೧ ಸಮಗ್ರ ವಚನ ಸಂಪುಟ

ಜನಪ್ರಿಯ ಆವೃತ್ತಿ

# ಅಲ್ಲಮಪ್ರಭುದೇವರ ವಚನಸಂಪುಟ

ಸಂಪಾದಕ
ಡಾ: ಬಿ. ವ್ಹಿ. ಮಲ್ಲಾಪುರ





ಕರ್ನಾಟಕ ಸರ್ಕಾರ
ಕನ್ನಡ ಪುಸ್ತಕ ಪ್ರಾಧಿಕಾರ
ಬೆಂಗಳೂರು

೧. ಬಸವಣ್ಣನವರ ವಚನಸಂಪುಟ - ಸಂ : ಡಾ. ಎಂ. ಎಂ. ಕಲಬುರ್ಗಿ
೨. ಅಲ್ಲಮಪ್ರಭುದೇವರ ವಚನಸಂಪುಟ - ಸಂ : ಡಾ. ಬಿ. ವ್ಹಿ. ಮಲ್ಲಾಪುರ
೩. ಚೆನ್ನಬಸವಣ್ಣನವರ ವಚನಸಂಪುಟ - ಸಂ : ಡಾ. ಬಿ. ವ್ಹಿ. ಮಲ್ಲಾಪುರ
೪. ಸಿದ್ಧರಾಮೇಶ್ವರ ವಚನಸಂಪುಟ - ಸಂ : ಡಾ. ಎಸ್. ವಿದ್ಯಾಶಂಕರ
೫. ಶಿವಶರಣೆಯರ ವಚನಸಂಪುಟ - ಸಂ : ಡಾ. ವೀರಣ್ಣ ರಾಜೂರ
೬. ಸಂಕೀರ್ಣ ವಚನಸಂಪುಟ : ಒಂದು - ಸಂ : ಡಾ. ಎಂ. ಎಂ. ಕಲಬುರ್ಗಿ
೭. ಸಂಕೀರ್ಣ ವಚನಸಂಪುಟ : ಎರಡು - ಸಂ : ಡಾ. ಎಸ್. ವಿದ್ಯಾಶಂಕರ
೮. ಸಂಕೀರ್ಣ ವಚನಸಂಪುಟ : ಮೂರು - ಸಂ : ಡಾ. ಬಿ. ಆರ್. ಹಿರೇಮಠ
೯. ಸಂಕೀರ್ಣ ವಚನಸಂಪುಟ : ನಾಲ್ಕು - ಸಂ : ಡಾ. ಬಿ. ಆರ್. ಹಿರೇಮಠ
೧೦. ಸಂಕೀರ್ಣ ವಚನಸಂಪುಟ : ಐದು - ಸಂ : ಡಾ. ವೀರಣ್ಣ ರಾಜೂರ
೧೧. ಸಂಕೀರ್ಣ ವಚನಸಂಪುಟ : ಆರು - ಸಂ : ಎಸ್. ಶಿವಣ್ಣ
೧೨. ಸಂಕೀರ್ಣ ವಚನಸಂಪುಟ : ಏಳು - ಸಂ : ಡಾ. ವೀರಣ್ಣ ರಾಜೂರ
೧೩. ಸಂಕೀರ್ಣ ವಚನಸಂಪುಟ : ಎಂಟು - ಸಂ : ಡಾ. ವೀರಣ್ಣ ರಾಜೂರ
೧೪. ಸಂಕೀರ್ಣ ವಚನಸಂಪುಟ : ಒಂಬತ್ತು - ಸಂ : ಡಾ. ವೀರಣ್ಣ ರಾಜೂರ
೧೫. ವಚನ ಪರಿಭಾಷಾಕೋಶ - ಸಂ : ಡಾ. ಎಸ್. ಜಿ. ಮಹಾದೇವಪ್ಪ

# ಅಲ್ಲಮಪ್ರಭುದೇವರ ವಚನಸಂಪುಟ

ಸಂಪಾದಕ
**ಡಾ. ಬಿ. ವ್ಹಿ. ಮಲ್ಲಾಪುರ**
ವಿಶ್ರಾಂತ ಕನ್ನಡ ಪ್ರಾಧ್ಯಾಪಕರು, ಕರ್ನಾಟಕ ವಿಶ್ವವಿದ್ಯಾಲಯ, ಧಾರವಾಡ



ಕರ್ನಾಟಕ ಸರ್ಕಾರ
**ಕನ್ನಡ ಪುಸ್ತಕ ಪ್ರಾಧಿಕಾರ**
ಬೆಂಗಳೂರು



# ಮುನ್ನುಡಿ

**ಎಸ್. ಎಂ. ಕೃಷ್ಣ**
ಮುಖ್ಯಮಂತ್ರಿಗಳು

ಕನ್ನಡನಾಡಿನ ಪ್ರಥಮ ಪ್ರಜಾಸಾಹಿತ್ಯವಾಗಿರುವ ವಚನವಾಙ್ಮಯ ನಮ್ಮ ಪರಂಪರೆಯ ಅಪೂರ್ವ ಸಾಂಸ್ಕೃತಿಕ ಆಸ್ತಿಯೆನಿಸಿದೆ. ಅನೇಕ ಜನ ವಿದ್ವಾಂಸರು, ಅನೇಕ ಸಂಸ್ಥೆಗಳು ಈ ಸಾಹಿತ್ಯವನ್ನು ಬೆಳಕಿಗೆ ತರಲು ಕಳೆದ ನೂರು ವರ್ಷಗಳಿಂದ ದುಡಿಯುತ್ತ ಬಂದುದು, ಇದರ ವ್ಯಾಪಕತೆಯ ದ್ಯೋತಕವಾಗಿದೆ. ಹೀಗೆ ಪ್ರಕಟವಾಗಿದ್ದ ಮತ್ತು ಅಪ್ರಕಟಿತ ಸ್ಥಿತಿಯಲ್ಲಿದ್ದ ಈ ಸಾಹಿತ್ಯದ ದ್ವಿತೀಯ ಆವೃತ್ತಿಯನ್ನು ವಚನ ಪರಿಭಾಷಾಕೋಶವೂ ಒಳಗೊಂಡಂತೆ ೧೫ ಸಂಪುಟಗಳ ಮೂಲಕ ಕರ್ನಾಟಕ ಸರ್ಕಾರ ಹೊರತರುತ್ತಿರುವುದು, ನಮ್ಮ ಸಾಹಿತ್ಯ ಪ್ರಕಟಣೆಯ ಇತಿಹಾಸದಲ್ಲಿ ಒಂದು ಗಣ್ಯ ಸಾಧನೆಯೆಂದೇ ಹೇಳಬೇಕು. ಈ ಪ್ರಜಾಸಾಹಿತ್ಯವನ್ನು ಪ್ರಜೆಗಳಿಗೆ ಮುಟ್ಟಿಸುವುದು ತನ್ನ ಕರ್ತವ್ಯವೆಂದು ಭಾವಿಸಿ, ಕರ್ನಾಟಕದ ಪ್ರಜಾಸರ್ಕಾರ ಈ ಕೆಲಸವನ್ನು ಪೂರೈಸಿದೆ.

ವಚನಸಾಹಿತ್ಯಕ್ಕೆ ನಮ್ಮ ನಾಡಿನಲ್ಲಿ ಸುಮಾರು ೮೦೦ ವರ್ಷಗಳ ಇತಿಹಾಸವಿದೆ. ಈವರೆಗೆ ಬಸವಯುಗದ ಬರವಣಿಗೆಯನ್ನು ಹೊರತರಲು ವಿದ್ವಾಂಸರು ಹೆಚ್ಚು ಗಮನ ಕೊಟ್ಟಿದ್ದರು. ಈ ಯೋಜನೆ ಅದನ್ನೂ ಒಳಗೊಂಡು, ಬಸವೋತ್ತರ ಯುಗದ ಮೇಲೆಯೂ ಒತ್ತುಕೊಟ್ಟುದು ವಿಶೇಷವೆನಿಸಿದೆ. ಇದರಿಂದಾಗಿ ಈ ಯೋಜನೆಗೆ "ಒಂದು ಸಾಹಿತ್ಯ ಪ್ರಕಾರದ ಪ್ರಕಟಣೆ" ಎಂಬ ಕೀರ್ತಿ ಸಲ್ಲುತ್ತದೆ.

ವಚನವೆಂಬುದು ಚಳುವಳಿ ಸಾಹಿತ್ಯಪ್ರಕಾರವಾಗಿದೆ. ಆತ್ಮಕಲ್ಯಾಣದೊಂದಿಗೆ ಸಮಾಜಕಲ್ಯಾಣವನ್ನೂ ಕಾರ್ಯಗತಗೊಳಿಸಲು ಹೋರಾಡಿ ಮಡಿದ ಹುತಾತ್ಮರ ಸಾಹಿತ್ಯವಿದು. ರಾಜಸತ್ತೆ, ಪುರೋಹಿತಸತ್ತೆ, ಪುರುಷಸತ್ತೆಗಳೆಂಬ ಪ್ರತಿಗಾಮಿ ಸತ್ತೆಗಳ ವಿರುದ್ಧ, ಕರ್ನಾಟಕದ ಎಲ್ಲ ಸಮಾಜದ ಜನರು ನಡೆಸಿದ ಹೋರಾಟದ ಉಪನಿಷ್ಪತ್ತಿಯಾದ ಈ ಸಾಹಿತ್ಯದಲ್ಲಿ ಜೀವಪರಧ್ವನಿಗಳು ದಟ್ಟವಾಗಿ ಕೇಳಿಸುತ್ತವೆ. ಪ್ರಾಚೀನ ಕರ್ನಾಟಕದ ಬೌದ್ಧಿಕ ಶ್ರಮದ ವಿದ್ವತ್ ಜನತಾಸಾಹಿತ್ಯಕ್ಕಿಂತ ದೈಹಿಕ ಶ್ರಮದ ಜನತಾಸಾಹಿತ್ಯ ಹೇಗೆ ಭಿನ್ನವಾಗಿದೆಯೆಂಬುದನ್ನು ಕಾಣಬೇಕಾದರೆ ನಾವು ಈ ಸಾಹಿತ್ಯಕ್ಕೇ ಮೊರೆಹೊಗಬೇಕು.

"ವಿಪ್ರ ಮೊದಲು ಅಂತ್ಯಜ ಕಡೆಯಾಗಿ" ಸಮಾಜದ ಎಲ್ಲ ವರ್ಗದ ಸ್ತ್ರೀ-ಪುರುಷರ ಸಂಕೀರ್ಣ ಧ್ವನಿಗಳು ಇದರಲ್ಲಿ ತುಂಬ ಕಲಾತ್ಮಕವಾಗಿ

ಎರಕಗೊಂಡಿವೆ. ಹೀಗಾಗಿ ಸಮಗ್ರ ಕರ್ನಾಟಕದ ಪ್ರಾತಿನಿಧಿಕ ಧ್ವನಿಯೆನಿಸಿದ ಈ ಸಾಹಿತ್ಯದ ಪ್ರಕಟನೆಯು ತನ್ನ ಕರ್ತವ್ಯದ ಭಾಗವೆಂದು ಭಾವಿಸಿರುವ ಕರ್ನಾಟಕ ಸರ್ಕಾರ, ಅದನ್ನು ಸುಲಭ ಬೆಲೆಯಲ್ಲಿ ಜನತೆಗೆ ನೀಡುತ್ತಿದೆ.

ಈ ಯೋಜನೆಯ ನೇತೃತ್ವ ವಹಿಸಿ ದುಡಿದ ಡಾ. ಎಂ. ಎಂ. ಕಲಬುರ್ಗಿ ಅವರ ಶ್ರದ್ಧೆಯನ್ನು, ಸಂಪಾದಕ ಮಂಡಳಿಯ ಮಾರ್ಗದರ್ಶನವನ್ನು, ಸಂಪಾದಕರ ಶ್ರಮವನ್ನು ಸ್ಮರಿಸುತ್ತ, ಈ ಐತಿಹಾಸಿಕ ಪ್ರಕಟನೆಯ ಪರಿಷ್ಕೃತ ದ್ವಿತೀಯ ಆವೃತ್ತಿ ಸಂಪುಟಗಳನ್ನು ಕನ್ನಡ ಜನತೆಗೆ ಅರ್ಪಿಸುತ್ತೇನೆ.





# ಬಿನ್ನಹ

**ರಾಣಿ ಸತೀಶ್**

ಕನ್ನಡ ಮತ್ತು ಸಂಸ್ಕೃತಿ ಸಚಿವರು

ಸಾಹಿತ್ಯಕ್ಕೆ ಸಾಹಿತ್ಯ, ಶಾಸ್ತ್ರಕ್ಕೆ ಶಾಸ್ತ್ರವಾಗಿರುವ ವಚನವಾಙ್ಮಯ ನಮ್ಮ ಪರಂಪರೆಯ ಅಪೂರ್ವ ಸೃಷ್ಟಿಯಾಗಿದೆ; ಅತ್ಯಪೂರ್ವ ಆಸ್ತಿಯೆನಿಸಿದೆ. ಪಂಡಿತರ ಮಾರ್ಗಸಾಹಿತ್ಯಕ್ಕೆ ಪ್ರತಿಯಾಗಿ ಸಾಮಾನ್ಯರ ಈ ದೇಶೀಸಾಹಿತ್ಯ ಹೊರಹೊಮ್ಮಿದ್ದು ೧೨ನೆಯ ಶತಮಾನದಲ್ಲಿ; ಕಲಚುರಿಗಳ ರಾಜಧಾನಿಯಾಗಿದ್ದ ಕಲ್ಯಾಣದಲ್ಲಿ; ಬಸವಾದಿ ಶರಣರ ಚಳುವಳಿಯಲ್ಲಿ.

ಮೂಲತಃ ಭಾರತೀಯರದು ಆತ್ಮ ಪರಮಾತ್ಮನಾಗಬೇಕೆಂಬ ವ್ಯಕ್ತಿಕೇಂದ್ರಿತ ಸಿದ್ಧಾಂತ. ಶರಣರು ಇದನ್ನು ಸಮಾಜಕೇಂದ್ರಿತ ಸಿದ್ಧಾಂತಕ್ಕೆ ವಿಸ್ತರಿಸಿದರು. ಹೀಗಾಗಿ ವ್ಯಕ್ತಿ ಕಲ್ಯಾಣದ ಜೊತೆ ಸಮಾಜಕಲ್ಯಾಣವೂ ಈ ಚಳುವಳಿಯ ಮುಖ್ಯ ಲಕ್ಷಣವೆನಿಸಿತು. ಸಾಹಿತ್ಯ ಸಾಹಿತ್ಯಕ್ಕಾಗಿ ಅಲ್ಲ, ವ್ಯಕ್ತಿ ಪರಿವರ್ತನೆಗಾಗಿ, ಸಮಾಜ ಪರಿವರ್ತನೆಗಾಗಿಯೆಂಬ ಸಿದ್ಧಾಂತ ಇಲ್ಲಿ ಅರ್ಥ ಪಡೆಯಿತು.

೧೨ನೆಯ ಶತಮಾನದ ಹೊತ್ತಿಗೆ, ಶೂದ್ರಜೀವ ದೇವನಾಗಲಾರನೆಂಬ ಸಿದ್ಧಾಂತ ಸ್ಥಾಪಿತವಾಗಿದ್ದಿತು. ಸಮಾಜದಲ್ಲಿ ಪುರುಷ-ಸ್ತ್ರೀ, ಪ್ರಭು-ಪ್ರಜೆ, ಬ್ರಾಹ್ಮಣ-ಶೂದ್ರರಲ್ಲಿ ಸಮಾನತೆ ಸಾಧ್ಯವಿಲ್ಲವೆಂಬ ಭೇದಸಂಸ್ಕೃತಿಯೂ ನಿರ್ಮಾಣವಾಗಿದ್ದಿತು. ಈಗ, ಶೂದ್ರನಿಗೂ ದೇವರಾಗುವ ಅರ್ಹತೆಯಿದೆ; ಸ್ತ್ರೀಗೆ ಪುರುಷನಷ್ಟು - ಪ್ರಜೆಗೆ ಪ್ರಭುವಿನಷ್ಟು - ಶೂದ್ರನಿಗೆ ಬ್ರಾಹ್ಮಣನಷ್ಟು ಅಧಿಕಾರವಿದೆಯೆಂದು ಶರಣರು ವಾದಿಸಿದರು. ಇದರ ಫಲವಾಗಿ, ಹೊಸ ಸಮಾಜವೊಂದು ಸೃಷ್ಟಿಯಾಯಿತು. ಇದರಿಂದಾಗಿ ಎಲ್ಲರೂ ಸ್ವತಂತ್ರರು, ಎಲ್ಲರೂ ಸಮಾನರು, ಎಲ್ಲರೂ ಸಹೋದರರೆಂಬ ತತ್ವ ಅನುಷ್ಠಾನಕ್ಕೆ ಬಂದಿತು. ಇದರ ಮುಂದುವರಿಕೆಯೆಂಬಂತೆ ಎಲ್ಲರೂ ದುಡಿಯಬೇಕು ಎಂಬ ಕಾಯಕತತ್ವ, ಎಲ್ಲರೂ ಹಂಚಿಕೊಂಡು ಉಣ್ಣಬೇಕು ಎಂಬ ದಾಸೋಹತತ್ವಗಳು ಆಕಾರ ಪಡೆದವು.

ಹೊಸ ಸಮಾಜದ ಈ ಎಲ್ಲ ನೆಲೆಗಳನ್ನು ಗುರಿಯಿಟ್ಟು ಆಡಿದ ಶರಣರ ಮಾತು ವಚನವೆಂಬ ಸಾಹಿತ್ಯಪ್ರಕಾರವಾಗಿ ಮೂಡಿತು. ವರ್ಗಭೇದ, ವರ್ಣಭೇದ, ಲಿಂಗಭೇದವೆನ್ನದೆ ಎಲ್ಲ ಜನವರ್ಗದವರ ಸಾವಿರ ಸಾವಿರ ವಚನಗಳು ಈ ಕಾಲದಲ್ಲಿ ಸೃಷ್ಟಿಯಾದವು. ಆದರೆ ಒಮ್ಮೆಲೇ ತಲೆದೋರಿದ ಕಲ್ಯಾಣ ಕ್ರಾಂತಿಯಿಂದಾಗಿ ಈ ಸಾಹಿತ್ಯ ನಾಡಿನ ತುಂಬ ಹರಿದು ಹಂಚಿಹೋಯಿತು.

ಹೀಗೆ ಹಂಚಿಹೋಗಿದ್ದ ಈ ಸಾಹಿತ್ಯವನ್ನು ೧೫-೧೬ನೆಯ ಶತಮಾನಗಳಲ್ಲಿ

ಶೋಧಿಸುವ, ಸಂಪಾದಿಸುವ ಪ್ರಯತ್ನ ನಡೆದು, ನೂರಾರು ಸಂಪಾದನ ಕೃತಿಗಳು ಹುಟ್ಟಿ ಬಂದು, ವಚನಸಾಹಿತ್ಯ ವೀರಶೈವ ಮಠಗಳಲ್ಲಿ ತಕ್ಕ ಮಟ್ಟಿಗೆ ರಕ್ಷಿಸಲ್ಪಟ್ಟಿತು. ದುರ್ದೈವದ ಸಂಗತಿಯೆಂದರೆ ಮಠಗಳಲ್ಲಿ ಪ್ರವೇಶ ಪಡೆದ ಸಂಸ್ಕೃತ ಭಾಷೆಯಿಂದಾಗಿ ಕನ್ನಡ ಭಾಷೆಯ ಈ ವಚನಗಳು ಅಲ್ಲಿ ಮೂಲೆ ಸೇರಿದವು.

ಹೀಗೆ ಮೂಲೆಗುಂಪಾಗಿದ್ದ ವಚನಸಾಹಿತ್ಯವು ೨೦ನೆಯ ಶತಮಾನದಲ್ಲಿ ಅನೇಕ ಜನ ವಿದ್ವಾಂಸರ, ಹತ್ತಾರು ಸಂಸ್ಥೆಗಳ ಪ್ರಯತ್ನದ ಫಲವಾಗಿ ಪ್ರಕಟಣೆಗೊಳ್ಳುತ್ತ ಬಂದಿತು. ಈಗ ೧೨ನೆಯ ಶತಮಾನದ ಶರಣಸಾಹಿತ್ಯ ಪ್ರಕಟನೆಗೆ ಒತ್ತುಬಿದ್ದರೂ ಅದು ಬಿಡಿಬಿಡಿಯಾಗಿ ಪ್ರಕಟಣೆಗೊಂಡಿತು. ಆ ತರುವಾಯದ ಶರಣ ಸಾಹಿತ್ಯವಂತೂ ಉಪೇಕ್ಷೆಗೆ ಗುರಿಯಾಯಿತು. ಈ ಎರಡೂ ಕೊರತೆಗಳನ್ನು ನೀಗಿಸುವ ಉದ್ದೇಶದಿಂದ ಎಲ್ಲ ಶರಣರ ಎಲ್ಲ ವಚನಗಳನ್ನು ಸಂಪುಟ ಶ್ರೇಣಿಯಲ್ಲಿ ಪ್ರಕಟಿಸಲು ಕರ್ನಾಟಕ ಸರಕಾರ "ಸಮಗ್ರ ವಚನಸಾಹಿತ್ಯದ ಜನಪ್ರಿಯ ಆವೃತ್ತಿ ಪ್ರಕಟನ ಯೋಜನೆ"ಯನ್ನು ಕೈಗೆತ್ತಿಕೊಂಡಿತು.

ಡಾ. ಎಂ. ಎಂ. ಕಲಬುರ್ಗಿಯವರ ಪ್ರಧಾನ ಸಂಪಾದಕತ್ವದಲ್ಲಿ ವ್ಯಾಪಕ ಕಾರ್ಯ ನಡೆದು, ೨೦ ಸಾವಿರ ವಚನ, ೧೦ ಸಾವಿರ ಪುಟಗಳನ್ನೊಳಗೊಂಡ ೧೫ ಸಂಪುಟಗಳು ೧೯೯೩ರಲ್ಲಿ ಬೆಳಕು ಕಂಡವು. ಆಶ್ಚರ್ಯದ ಸಂಗತಿಯೆಂದರೆ ಇದರ ೫ ಸಾವಿರ ಪ್ರತಿಗಳು ಒಂದೇ ವರ್ಷದಲ್ಲಿ ಮಾರಾಟವಾಗಿ, ಜನರಿಂದ ಬೇಡಿಕೆ ಹೆಚ್ಚುತ್ತ ನಡೆಯಿತು. ಇದನ್ನು ಪೂರೈಸುವ ದಿಕ್ಕಿನಲ್ಲಿ ಪರಿಷ್ಕೃತ ದ್ವಿತೀಯ ಆವೃತ್ತಿ ಈಗ ಹೊರಬರುತ್ತಲಿದೆ. ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಸಚಿವೆಯಾಗಿ ಕನ್ನಡದ ಈ ಅಪೂರ್ವ ಆಸ್ತಿಯನ್ನು ಕನ್ನಡ ಜನತೆಗೆ ಅರ್ಪಿಸುತ್ತೇನೆ.





# ನಿರ್ದೇಶಕರ ಮಾತು

**ಕೆ. ಸಿ. ರಾಮಮೂರ್ತಿ**
ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ನಿರ್ದೇಶನಾಲಯ

ವಚನಸಾಹಿತ್ಯ, ಕರ್ನಾಟಕದ ಬಹುದೊಡ್ಡ ಸಾಂಸ್ಕೃತಿಕ ಸಂಪತ್ತು. ಪ್ರಾಚೀನ ಕರ್ನಾಟಕದ ಜನಸಾಮಾನ್ಯರ ಧ್ವನಿಯಾಗಿರುವ ಇದನ್ನು ಪ್ರಕಟಿಸುವುದು, ಪ್ರಸಾರ ಮಾಡುವುದು ಜನತಂತ್ರ ಸರಕಾರದ ಮುಖ್ಯ ಕರ್ತವ್ಯವಾಗಿದೆ.

ಭಾರತದಲ್ಲಿ ಆತ್ಮೋದ್ಧಾರದ ಬಗ್ಗೆ ಉದಾತ್ತ ತತ್ವಗಳನ್ನು ಪ್ರತಿಪಾದಿಸುತ್ತ ಬಂದಿದ್ದರೂ ಸಮಾಜೋದ್ಧಾರದ ಬಗ್ಗೆ ಉಪೇಕ್ಷೆ ಬೆಳೆದು, ಅಲ್ಲಿ ಶೋಷಣೆ ವರ್ಧಿಸುತ್ತ ಬಂದುದು ನಮ್ಮ ಇತಿಹಾಸದ ಒಂದು ವಿಪರ್ಯಾಸವೇ ಸರಿ. ೧೨ನೆಯ ಶತಮಾನದಲ್ಲಿ ಉಲ್ಬಣಗೊಂಡಿದ್ದ ಈ ವಿಷಮ ಪರಿಸ್ಥಿತಿಯನ್ನು ನಾಶಗೊಳಿಸಿ, ಸಮಸ್ಥಿತಿಯನ್ನು ಸಮಾಜದಲ್ಲಿ ತರಲು ಹೋರಾಡಿದವರು, ಕಲ್ಯಾಣದ ಶರಣರು. ಈ ಕಾರ್ಯಕ್ಕಾಗಿ ಅವರು ಕೈಕೊಡ ಜನಪರ ಆಂದೋಲನ ನಮ್ಮ ದೇಶದ ಇತಿಹಾಸದಲ್ಲಿಯೇ ಒಂದು ವಿಶಿಷ್ಟ ಘಟನೆಯಾಗಿದೆ.

ಭಾರತದಲ್ಲಿ ರಾಜಸತ್ತೆಯ ಸ್ಥಾಪನೆಗಾಗಿ ರಾಜರು, ಮತಸತ್ತೆಯ ಸ್ಥಾಪನೆಗಾಗಿ ಧರ್ಮಗಳು ಪರಸ್ಪರ ಸಂಘರ್ಷಕ್ಕಿಳಿದುದು ಸರ್ವಶ್ರುತ. ಆದರೆ ಸಾಮಾಜಿಕ ನ್ಯಾಯದ ಸ್ಥಾಪನೆಗಾಗಿ ಈ ರಾಜಸತ್ತೆ, ಮತಸತ್ತೆಗಳ ವಿರುದ್ಧ ಸಮಾಜದ ವಿವಿಧ ಸ್ತರಗಳ ಜನತೆ, ಅದರಲ್ಲಿಯೂ ದೀನರು-ದಲಿತರು-ಮಹಿಳೆಯರು ಬೀದಿಗಿಳಿದು ನಡೆಸಿದ ಈ ಆಂದೋಲನ, ಇಪ್ಪತ್ತನೆಯ ಶತಮಾನವೂ ಆಶ್ಚರ್ಯಪಡುವ ಸಂಗತಿಯಾಗಿದೆ.

ಅಂದಿನ ಸನ್ನಿವೇಶಕ್ಕೆ ಅನುಗುಣವಾಗಿ ಧಾರ್ಮಿಕ ಕ್ಷೇತ್ರದಲ್ಲಿ ಅಂಕುರಿಸಿದ ಈ ಆಂದೋಲನ, ಸಾಮಾಜಿಕ ಕ್ಷೇತ್ರವನ್ನೂ ಆವರಿಸಿದ ಕಾರಣ, ಇವನ್ನು 'ಸಮಾಜೋ ಧಾರ್ಮಿಕ' ಆಂದೋಲನವೆಂದು ಗುರುತಿಸಲಾಗುತ್ತದೆ. ಸಮಾಜವೆನ್ನುವುದು ಸಂಕೀರ್ಣ ವ್ಯವಸ್ಥೆ. ಅದರ ಎಲ್ಲ ಸ್ತರಗಳನ್ನೂ ಎಲ್ಲ ಮಗ್ಗುಲುಗಳನ್ನೂ ಬದಲಿಸಲು ಮಾಡಿದ ಪ್ರಯತ್ನವಾಗಿರುವುದರಿಂದ ಇದು ಒಂದು "ಸಮಗ್ರ ಆಂದೋಲನ"ವಾಗಿದೆ. ಈ ಆಂದೋಲನದ ನೇರ ಧ್ವನಿ, ವಚನಸಾಹಿತ್ಯ.

ಹನ್ನೆರಡನೆಯ ಶತಮಾನದಲ್ಲಿ ಬಸವಣ್ಣನಿಂದಾಗಿ ವ್ಯಕ್ತಿ ಸ್ವಾತಂತ್ರ್ಯ ಪಡೆದ ಜನವರ್ಗವು ವ್ಯಕ್ತಪಡಿಸಿದ ಅಭಿಪ್ರಾಯ ಸ್ವಾತಂತ್ರ್ಯದ ಫಲ, ಈ ಸಾಹಿತ್ಯ. ಹೀಗಾಗಿ ಇಲ್ಲಿ ಆತ್ಮವಿಮರ್ಶೆಯಷ್ಟೇ ವಿಪುಲವಾಗಿ ಸಮಾಜವಿಮರ್ಶೆಯನ್ನೂ ಕಾಣಬಹುದಾಗಿದೆ. ಅದರಲ್ಲಿಯೂ ವರ್ಣಭೇದ ನಿರಾಕರಣೆ, ವರ್ಗಭೇದ

ನಿರಾಕರಣೆ, ಲಿಂಗಭೇದ ನಿರಾಕರಣೆಗಳಂಥ ವಿಚಾರಗಳು ಸ್ಫೋಟಗೊಂಡುದು ಲಕ್ಷಿಸತಕ್ಕ ಸಂಗತಿಯಾಗಿದೆ. ಇಲ್ಲಿ ಪುರುಷರಷ್ಟೇ ಪ್ರಧಾನವಾಗಿ ಮಹಿಳೆಯರೂ, ಕುಲಜರಷ್ಟೇ ಪ್ರಧಾನವಾಗಿ ಅಂತ್ಯಜರೂ, ಪ್ರಭುಗಳಷ್ಟೇ ಪ್ರಧಾನವಾಗಿ ಪ್ರಜೆಗಳೂ ಬಾಳಿದುದು, ಬರೆದುದು ಬಹುಶಃ ಜಗತ್ತಿನ ಇತಿಹಾಸದಲ್ಲಿಯೇ ಏಕೈಕ ಉದಾಹರಣೆಯಾಗಿದೆ. ಇಂಥ ವಿಚಾರಶೀಲರ ಅಂದರೆ ಇವರ ತತ್ವ-ಸಾಹಿತ್ಯಗಳ ಉತ್ತರಾಧಿಕಾರಿಗಳಾದುದು ನಮ್ಮ ಭಾಗ್ಯ; ಇವರ ಸಾಹಿತ್ಯಸಂಪತ್ತನ್ನು ರಕ್ಷಿಸುವುದು, ಪ್ರಸಾರಮಾಡುವುದು ನಮ್ಮ ಕರ್ತವ್ಯ. ಈ ಕರ್ತವ್ಯದ ಭಾಗವಾಗಿ "ಸಮಗ್ರ ವಚನಸಾಹಿತ್ಯದ ಜನಪ್ರಿಯ ಆವೃತ್ತಿ ಪ್ರಕಟನ ಯೋಜನೆ"ಯನ್ನು ಕರ್ನಾಟಕ ಸರಕಾರ ಕೈಗೆತ್ತಿಕೊಂಡಿತು.

ಈವರೆಗೆ ವಚನಸಾಹಿತ್ಯ ಬಿಡಿಬಿಡಿಯಾಗಿ ಭಾಗಶಃ ಪ್ರಕಟವಾಗಿದ್ದಿತು, ಕೆಲವು ಭಾಗ ಅಪ್ರಕಟಿತ ಸ್ಥಿತಿಯಲ್ಲಿ ಉಳಿದಿದ್ದಿತು. ಇದೆಲ್ಲವನ್ನು ಕ್ರೋಢೀಕರಿಸಿ, ಪರಿಷ್ಕರಿಸಿ ಪ್ರಕಟಿಸುವುದು ಶ್ರಮದ ಕೆಲಸ. ಡಾ. ಎಂ. ಎಂ. ಕಲಬುರ್ಗಿಯವರ ಪ್ರಧಾನ ಸಂಪಾದಕತ್ವದಲ್ಲಿ, ಅನೇಕ ಜನ ವಿದ್ವಾಂಸರ ಮತ್ತು ಸಂಪಾದಕ ಮಂಡಳಿ ಸದಸ್ಯರ ಸಂಯುಕ್ತ ಪರಿಶ್ರಮದಿಂದ ಈ ಬೃಹತ್ ಯೋಜನೆ ಪೂರ್ತಿಗೊಂಡುದು ಸಂತೋಷದ ಸಂಗತಿ. ಕನ್ನಡ ಮತ್ತು ಸಂಸ್ಕೃತಿ ನಿರ್ದೇಶನಾಲಯದ ಆಶ್ರಯದಲ್ಲಿ ಅಸ್ತಿತ್ವಕ್ಕೆ ಬಂದು, ನಿರ್ದಿಷ್ಟ ಅವಧಿಯಲ್ಲಿ ಪೂರ್ಣಗೊಂಡ ಈ ಐತಿಹಾಸಿಕ ಯೋಜನೆಗಾಗಿ ಸಂಬಂಧಪಟ್ಟ ಎಲ್ಲ ವಿದ್ವಾಂಸರನ್ನು ಅಭಿನಂದಿಸುತ್ತೇನೆ. ಕನ್ನಡ ಪುಸ್ತಕ ಪ್ರಾಧಿಕಾರದ ಮೂಲಕ ಪ್ರಕಟವಾಗುತ್ತಲಿರುವ ಈ ಪರಿಷ್ಕೃತ ದ್ವಿತೀಯ ಆವೃತ್ತಿ ಸಂಪುಟಗಳನ್ನು ಕನ್ನಡ ಜನತೆಗೆ ಅರ್ಪಿಸುತ್ತೇನೆ.





# ಪ್ರಕಾಶಕರ ಮಾತು

**ಪ್ರೊ. ಮಲ್ಲೇಪುರಂ ಜಿ. ವೆಂಕಟೇಶ**
ಅಧ್ಯಕ್ಷರು, ಕನ್ನಡ ಪುಸ್ತಕ ಪ್ರಾಧಿಕಾರ

ಸಮಗ್ರ ವಚನ ಸಂಪುಟಗಳ ಪರಿಷ್ಕೃತ ಆವೃತ್ತಿ ಪ್ರಕಟಣೆ ಕರ್ನಾಟಕ ಸಾಂಸ್ಕೃತಿಕ ಇತಿಹಾಸದಲ್ಲಿ ನಡೆದಿರುವ ಒಂದು ದಿವ್ಯಘಟನೆ. ವಚನಸಾಹಿತ್ಯದ ಪ್ರಕಟಣೆಗೆ ಸುಮಾರು ಎಂಬತ್ತು ವರ್ಷಗಳ ಇತಿಹಾಸವಿದೆ. ವಚನಪಿತಾಮಹ ಶ್ರೀ ಫ. ಗು. ಹಳಕಟ್ಟಿ ಅವರಿಂದ ಪ್ರಕಟಣೆಯ ದಿವ್ಯಘಟನೆ ಆರಂಭಗೊಂಡಿತು. ಇದೀಗ ಡಾ. ಎಂ. ಎಂ. ಕಲಬುರ್ಗಿಯವರ ಪ್ರಧಾನ ಸಂಪಾದಕತ್ವದ ಮೂಲಕ ಸಹಸ್ರಮಾನದ ಸೂರ್ಯೋದಯದ ವೇಳೆಗೆ ಇದು ಒಂದು ಪೂರ್ಣ ಘಟ್ಟಕ್ಕೆ ಬಂದಿದೆ. ಶರಣ ಸಾಹಿತ್ಯದ ಪ್ರಕಟಣೆಯ ಇತಿಹಾಸದಲ್ಲಿ ಇದು ಚಾರಿತ್ರಿಕ ಘಟನೆಯೇ ಸರಿ. ಈ ನಡುವೆ ವಚನಸಾಹಿತ್ಯದ ಸಹಸ್ರಾರು ಬಿಡಿ ಪ್ರಕಟಣೆಗಳು ಹೊರಬಂದಿವೆ. ವಿಶ್ವವಿದ್ಯಾಲಯಗಳು, ಖಾಸಗಿ ಸಂಸ್ಥೆಗಳು, ಮಠಗಳು, ಶಿಕ್ಷಣ ಕೇಂದ್ರಗಳು, ಖಾಸಗಿ ಪ್ರಕಾಶಕರು, ಆಸಕ್ತ ಲೇಖಕರು ಬಿಡಿಬಿಡಿಯಾಗಿ ವಚನಸಾಹಿತ್ಯದ ಪ್ರಕಟಣೆಗಳನ್ನು ಹೊರತಂದಿದ್ದಾರೆ. ನಾವು ಪ್ರೀತಿಯಿಂದ ಇವರನ್ನೆಲ್ಲ ಈ ಹೊತ್ತಿನಲ್ಲಿ ನೆನೆಯುವುದು, ಆ ಪಾತ್ರಃಸ್ಮರಣೀಯರ ಹಾದಿಯಲ್ಲಿ ಮುನ್ನಡೆಯುವುದು ನಮ್ಮ ಸಾಂಸ್ಕೃತಿಕ ಕರ್ತವ್ಯ.

ಸಮಗ್ರ ವಚನ ಸಂಪುಟಗಳು ಕನ್ನಡ ಮತ್ತು ಸಂಸ್ಕೃತಿ ಇಲಾಖೆಯಿಂದ ೧೯೯೩ರಲ್ಲಿ ಪ್ರಕಟಗೊಂಡಿದ್ದವು. ಆ ಸಂಪುಟಗಳು ಪ್ರಕಟವಾದ ವರ್ಷವೇ ಕನ್ನಡಿಗರ ಮನೆಯನ್ನು ಸೇರಿಕೊಂಡವು. ಆದರೆ, ಸಂಪುಟಗಳ ಬೇಡಿಕೆ ಮಹಾಜನರಿಂದ ಇದ್ದೇ ಇತ್ತು. ಆನಂತರ ಕರ್ನಾಟಕ ಸರ್ಕಾರ ಪರಿಷ್ಕೃತ ಆವೃತ್ತಿಗೆ ತಾತ್ವಿಕ ಒಪ್ಪಿಗೆ ನೀಡಿತು. ಹೀಗೆ ಒಪ್ಪಿಗೆ ನೀಡಿದ ಸಂಸ್ಕೃತಿ ಸಂಪನ್ನರೂ ಮುಖ್ಯಮಂತ್ರಿಗಳೂ ಆದ ಸನ್ಮಾನ್ಯ ಶ್ರೀ ಎಸ್. ಎಂ. ಕೃಷ್ಣ ಅವರನ್ನು ತುಂಬು ಹೃದಯದಿಂದ ಈ ಪ್ರಕಟಣೆಯ ದಿವ್ಯಘಟನೆಯ ಹೊತ್ತಿನಲ್ಲಿ ಸ್ಮರಿಸಿಕೊಳ್ಳುತ್ತೇನೆ. ಅನಂತರ ನಾಡಿನ ಶ್ರೇಷ್ಠ ವಿದ್ವಾಂಸರಾದ ಡಾ. ಎಂ. ಎಂ. ಕಲಬುರ್ಗಿ ಅವರ ಪ್ರಧಾನ ಸಂಪಾದಕತ್ವದಲ್ಲಿ ವಚನ ಸಂಪುಟಗಳ ಪರಿಷ್ಕೃತ ಆವೃತ್ತಿ ಸಿದ್ಧಗೊಂಡವು. ಕನ್ನಡ ಮತ್ತು ಸಂಸ್ಕೃತಿ ಇಲಾಖೆಯು ಈ ಸಂಪುಟಗಳನ್ನು ಪ್ರಕಟಿಸಬೇಕಿತ್ತು. ಆದರೆ, ಆ ಕಾರ್ಯವನ್ನು ಕನ್ನಡ ಪುಸ್ತಕ ಪ್ರಾಧಿಕಾರಕ್ಕೆ ಒಪ್ಪಿಸಿದ್ದು ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಔದಾರ್ಯ; ಅದನ್ನು ಪಡೆದು ಪ್ರಕಟಿಸುತ್ತಿರುವುದು ಪುಸ್ತಕ ಪ್ರಾಧಿಕಾರದ ಭಾಗ್ಯ. ಈ ಭಾಗ್ಯಕ್ಕೆ ಕಾರಣರಾದವರು ಕನ್ನಡ ಮತ್ತು ಸಂಸ್ಕೃತಿ

ಇಲಾಖೆಯ ಸಚಿವೆಯರಾದ ಮಾನ್ಯ ಶ್ರೀಮತಿ ರಾಣಿ ಸತೀಶ್ ಮತ್ತು ಕನ್ನಡ ಮತ್ತು ಸಂಸ್ಕೃತಿ ನಿರ್ದೇಶನಾಲಯದ ನಿರ್ದೇಶಕರಾದ ಶ್ರೀ ಕೆ. ಸಿ. ರಾಮಮೂರ್ತಿ. ಇವರಿಬ್ಬರ ಆಸಕ್ತಿಯ ಫಲ ಈ ಕಾರ್ಯವನ್ನು ಆಗುಗೊಳಿಸಿತು. ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಮಾನ್ಯ ಸಚಿವೆಯರ ಆಪ್ತ ಕಾರ್ಯದರ್ಶಿ ಡಾ. ಎ. ಆರ್. ಮಂಜುನಾಥ್, ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಕಾರ್ಯದರ್ಶಿ ಶ್ರೀ ಸಿ. ಎಸ್. ಕೇದಾರ್, ಕನ್ನಡ ಸಂಸ್ಕೃತಿ ನಿರ್ದೇಶನಾಲಯದ ಜಂಟಿ ನಿರ್ದೇಶಕ ಶ್ರೀ ಕಾ. ತ. ಚಿಕ್ಕಣ್ಣ ಪ್ರಕಟಣೆಯ ವಿವಿಧ ಹಂತಗಳಲ್ಲಿ ನನಗೆ ನೆರವಾಗಿದ್ದಾರೆ. ಈ ಮೇಲಿನ ಎಲ್ಲ ಮಹನೀಯರಿಗೂ ಕನ್ನಡ ಪುಸ್ತಕ ಪ್ರಾಧಿಕಾರವು ಅನನ್ಯವಾದ ಕೃತಜ್ಞತೆಯನ್ನು ಅರ್ಪಿಸುತ್ತದೆ.

ಸಮಗ್ರವಚನ ಸಂಪುಟಗಳ ಪರಿಷ್ಕೃತ ಆವೃತ್ತಿಯ ಸಂಪಾದಕ ಮಂಡಳಿಯ ವಿದ್ವಾಂಸರಾದ ಡಾ. ಎಂ. ಎಂ. ಕಲಬುರ್ಗಿ, ಡಾ. ಎಂ. ಚಿದಾನಂದಮೂರ್ತಿ, ಡಾ. ಸಿ. ಪಿ. ಕೃಷ್ಣಕುಮಾರ್, ಡಾ. ಎಸ್. ವಿದ್ಯಾಶಂಕರ್, ಎಸ್. ಶಿವಣ್ಣ ಇವರನ್ನು, ಕನ್ನಡ ಪುಸ್ತಕ ಪ್ರಾಧಿಕಾರದ ಮೂಲಕ ಹೊರತರಲು ಒಪ್ಪಿಗೆ ನೀಡಿದ ಪುಸ್ತಕ ಪ್ರಾಧಿಕಾರದ ಸ್ಥಾಯಿಸಮಿತಿ ಸದಸ್ಯರಾದ ಪ್ರೊ. ರಾಮೇಗೌಡ, ಶ್ರೀ ಆರ್. ಜಿ. ಹಳ್ಳಿ ನಾಗರಾಜ್, ಪ್ರೊ. ಸಿದ್ಧಪ್ಪ ಉತ್ನಾಳ್, ಶ್ರೀ ಛಾಯಾಪತಿ ಮತ್ತು ಶ್ರೀಮತಿ ಇಂದಿರಾ ಶಿವಣ್ಣ ಇವರನ್ನು ತುಂಬು ಮನಸ್ಸಿನಿಂದ ನೆನೆಯುತ್ತೇನೆ. ಹದಿನೈದು ಸಂಪುಟಗಳ ಅಕ್ಷರ ಜೋಡಣೆ ಮಾಡಿಕೊಟ್ಟವರನ್ನು, ಬಹು ಅಂದವಾಗಿ ಮುದ್ರಿಸಿದವರನ್ನು, ಸುಂದರವಾಗಿ ಮತ್ತು ಆಕರ್ಷಕವಾಗಿ ಸಂಪುಟಗಳನ್ನು ಬೈಂಡ್ ಮಾಡಿಕೊಟ್ಟವರನ್ನು, ಮುಖಪುಟ ವಿನ್ಯಾಸ ಮಾಡಿಕೊಟ್ಟವರನ್ನು, ತುಂಬು ಪ್ರೀತಿಯಿಂದ ನೆನೆಯುವುದು ನನ್ನ ಕರ್ತವ್ಯ. ಇವರ ಮುದ್ರಣ ಪರಿಣತಿಯ ಫಲ ಈ ಸಂಪುಟಗಳಿಗೆ ದೊರಕಿ ಅಂದವಾಗಲು ಕಾರಣವಾಗಿದೆ. ಪುಸ್ತಕ ಪ್ರಾಧಿಕಾರದ ಆಡಳಿತಗಾರರಾದ ಶ್ರೀ ಬಲವಂತರಾವ್ ಪಾಟೀಲ ನನ್ನೊಡನೆ ಉದ್ದಕ್ಕೂ ಸಹಕರಿಸಿದ್ದಾರೆ. ಈ ಮೇಲೆ ಹೆಸರಿಸಿದ ಎಲ್ಲ ಮಹನೀಯರನ್ನು ಕೃತಜ್ಞತಾಪೂರ್ವಕವಾಗಿ ನೆನೆಯುತ್ತೇನೆ.

ಕನ್ನಡ ಪುಸ್ತಕ ಪ್ರಾಧಿಕಾರವು ಪ್ರಕಟಿಸುತ್ತಿರುವ ಸಮಗ್ರ ವಚನ ಸಂಪುಟಗಳನ್ನು ಕನ್ನಡದ ಮಹಾಜನತೆ ಪ್ರೀತಿಯಿಂದ ಸ್ವೀಕರಿಸಬೇಕೆಂದು ಬೇಡುತ್ತೇನೆ.





# ಸಂಪಾದಕೀಯ

**ಡಾ. ಎಂ. ಎಂ. ಕಲಬುರ್ಗಿ**
ಪ್ರಧಾನ ಸಂಪಾದಕರು

ಕರ್ನಾಟಕದ ಇತಿಹಾಸದಲ್ಲಿ ಶಿವಶರಣರ ಚಳುವಳಿ ಒಂದು ಅಪೂರ್ವ ಘಟನೆ, ವಚನಗಳ ಸೃಷ್ಟಿ ಒಂದು ಅನನ್ಯ ಪ್ರಯೋಗ. ಸಮಾಜದ ಎಲ್ಲ ವರ್ಗ, ಎಲ್ಲ ವರ್ಣಗಳ ಜನಸಮುದಾಯ ಬಸವಣ್ಣನವರ ನೇತೃತ್ವದಲ್ಲಿ ಕೈಕೊಂಡಿದ್ದ ವ್ಯಕ್ತಿಕಲ್ಯಾಣ ಮತ್ತು ಸಮಾಜಕಲ್ಯಾಣ ಚಳುವಳಿಯ ಸೃಷ್ಟಿಯೆನಿಸಿದ ಈ ವಚನಗಳು, ಜಾಗತಿಕ ಸಾಹಿತ್ಯದ ಮಹತ್ವಪೂರ್ಣ ಭಾಗವೆನಿಸಿವೆ.

'ವಚನ' ಶಬ್ದಕ್ಕೆ ಇಲ್ಲಿ ಗದ್ಯ ಸಾಹಿತ್ಯಪ್ರಕಾರವೆಂದು ಅರ್ಥವಲ್ಲ; ಪ್ರತಿಜ್ಞೆ, ಆತ್ಮಸಾಕ್ಷಿಯ ಮಾತು ಎಂದು ಅರ್ಥ. ನಡೆ ಹೇಗೇ ಇರಲಿ, ನುಡಿ ಮಾತ್ರ ಕಲಾತ್ಮಕವಾಗಿದ್ದುದು 'ರಚನೆ'ಯಾದರೆ, ನಡೆದಂತೆ ನುಡಿದ ಆತ್ಮಸಾಕ್ಷಿಯ ವಾಣಿ 'ವಚನ'ವೆನಿಸುತ್ತದೆ.

ವಚನಗಳು ಆಚಾರ್ಯರ ಸಾಹಿತ್ಯವಲ್ಲ, ಅನುಭಾವಿಗಳ ಸಾಹಿತ್ಯ. ಆಚಾರ್ಯರು ಜೀವಿಸಿರುವಾಗಲೇ ತಮ್ಮ ವಿಚಾರಗಳನ್ನು ಬರೆದು, ಅವುಗಳಿಗೆ ಸಂವಿಧಾನಾತ್ಮಕ ಮುದ್ರೆ ಒತ್ತುತ್ತಾರೆ. ಅನುಭಾವಿಗಳು ಮಾತ್ರ ತಮ್ಮ ಚಿಂತನೆಯನ್ನು ಹೃದಯದಿಂದ ಹೃದಯಕ್ಕೆ ಮುಟ್ಟುವಂತೆ ಬಿಡಿಮಾತುಗಳ ಮೂಲಕ ಹೇಳುತ್ತಾರೆ. ಬಿಡಿಮುತ್ತುಗಳಂತೆ ಸೂರೆಯಾದ ಅವುಗಳನ್ನು ಸಂಗ್ರಹಿಸುವ, ಸಂಕಲಿಸುವ, ಸಂಪಾದಿಸುವ ಕೆಲಸವನ್ನು ಉತ್ತರಕಾಲೀನ ಅನುಯಾಯಿಗಳು ಮಾಡುತ್ತಾರೆ. ಏಸುವಿನ ವಾಣಿಯಾದ ಬೈಬಲ್, ಮಹಮ್ಮದನ ಉಪದೇಶವಾದ ಕುರಾನ್, ಬುದ್ಧನ ಬೋಧೆಯಾದ ತ್ರಿಪಿಟಕ, ಶರಣರ ಸಂದೇಶವಾದ ವಚನಕೃತಿಗಳು ಈ ಬಗೆಯ ಉತ್ತರಕಾಲೀನ ಸಂಕಲನಗಳಾಗಿವೆ.

ಮೂಲತಃ ವಚನನಿಧಿ ಜನರಿಂದ, ಜನರಿಗಾಗಿ ಹುಟ್ಟಿ, ಜನರ ಮಧ್ಯದಲ್ಲಿ ಬಾಳಿದ ಸಾಹಿತ್ಯವಾಗಿದೆ. ಹೀಗಾಗಿ ಹನ್ನೆರಡರಿಂದ ಹದಿನೈದನೆಯ ಶತಮಾನಕ್ಕೆ ಬರುವಷ್ಟರಲ್ಲಿ ಅದಕ್ಕೆ ವಿಪುಲ ಭಿನ್ನಪಾಠಗಳು ಹುಟ್ಟಿಕೊಂಡವು. ಆಮೇಲೆ ಸಂಕಲನ-ಸಂಪಾದನ ಕಾರ್ಯದಿಂದಾಗಿ ಕೆಲವೊಮ್ಮೆ ಪ್ರಕ್ಷಿಪ್ತ ವಚನಗಳೂ ತಲೆಯೆತ್ತಿದವು. ಈ ಗೊಂದಲ ಕಾರಣವಾಗಿ ಕವಿಸಾಹಿತ್ಯಕ್ಕಿಂತ ವಚನಸಾಹಿತ್ಯದ ಸಂಪಾದನಕಾರ್ಯ ತುಂಬ ಜಟಿಲಸ್ವರೂಪ ದ್ದಾಗಿದೆ.

ಪ್ರಾಚೀನ ಕನ್ನಡ ಸಾಹಿತ್ಯದ ಪ್ರಕಟನಕಾರ್ಯವನ್ನು ಮೊದಲು ಕೈಗೆತ್ತಿಕೊಂಡವರು, ಕ್ರೈಸ್ತ ಪಾದ್ರಿಗಳು. ಜೈನ ಪುರಾಣ-ಕಾವ್ಯಗಳನ್ನು, ವೈದಿಕ ಪುರಾಣ-ಕೀರ್ತನೆಗಳನ್ನು, ವೀರಶೈವ ಶಾಸ್ತ್ರ-ಪುರಾಣಗಳನ್ನು ಪ್ರಕಟಿಸಿದ ಇವರು, ವಚನಸಾಹಿತ್ಯವನ್ನು ಮಾತ್ರ ತಪ್ಪಿಯೂ ಪ್ರಕಟಿಸಲಿಲ್ಲ. ದೇಶೀ ವಿದ್ವಾಂಸರೇ ಈ ಕೆಲಸವನ್ನು ಪ್ರಾರಂಭ ಮಾಡಬೇಕಾಯಿತು. ಈ

ದಿಸೆಯಲ್ಲಿ ಮೊದಲು ಪ್ರಕಟವಾದ ವಚನಕೃತಿ (೧೮೮೩) 'ಅಪ್ರಮಾಣ ಕೂಡಲ ಸಂಗಮದೇವಾ' ಮುದ್ರಿಕೆಯ ವಚನಗಳನ್ನೊಳಗೊಂಡ "ಶಿಖಾರತ್ನಪ್ರಕಾಶ"[1]. ಆಮೇಲೆ ಒಂದು ಮೈಲಿಗಲ್ಲಿನಂತೆ ಪ್ರಕಟವಾದ ವಚನಕೃತಿ, ಬಸವಣ್ಣನವರ ಷಟ್‌ಸ್ಥಲವಚನ ಸಂಪುಟ. ಅದು ಮೊದಲು ಬೆಳಕು ಕಂಡುದು ೧೮೮೯ರಲ್ಲಿ[2]. ಅಲ್ಲಿಂದ ಸರಿಯಾಗಿ ಒಂದು ಶತಮಾನ ಕಳೆಯುವಷ್ಟರಲ್ಲಿ ಅಂದರೆ ೧೯೮೮ರಲ್ಲಿ ಈ 'ಸಮಗ್ರ ವಚನಸಾಹಿತ್ಯದ ಜನಪ್ರಿಯ ಆವೃತ್ತಿ ಪ್ರಕಟನ ಯೋಜನೆ' ಅಸ್ತಿತ್ವಕ್ಕೆ ಬಂದುದು ಒಂದು ಯೋಗಾಯೋಗವಾಗಿದೆ; ವಚನಸಾಹಿತ್ಯದ ಪ್ರಕಟನಚರಿತ್ರೆಯ ಶತಮಾನಸ್ಮರಣೆಯಾಗಿದೆ.

ಈ ನೂರು ವರ್ಷಗಳ ಕಾಲವ್ಯಾಪ್ತಿಯಲ್ಲಿ ವಚನಸಾಹಿತ್ಯ ಪ್ರಕಟಣೆಗಾಗಿ ಅನೇಕರು ದುಡಿದಿರುವರಾದರೂ ಯೋಜನಾಬದ್ಧ ವ್ಯಾಪಕ ಪ್ರಯತ್ನಗಳು, ವಿಜಾಪುರ, ಧಾರವಾಡ, ಗದಗಗಳಲ್ಲಿ ಹೀಗೆ ಜರುಗಿವೆ :

೧. ಶಿವಾನುಭವ ಗ್ರಂಥಮಾಲೆ, ವಿಜಾಪುರ - ಡಾ. ಫ. ಗು. ಹಳಕಟ್ಟಿ

೨. ಕನ್ನಡ ಅಧ್ಯಯನ ಪೀಠ, ಕ. ವಿ. ಧಾರವಾಡ - ಡಾ. ಆರ್. ಸಿ. ಹಿರೇಮಠ

೩. ತೋಂಟದಾರ್ಯಮಠ, ಗದಗ - ಡಾ. ಎಂ. ಎಂ. ಕಲಬುರ್ಗಿ

ವಚನಸಾಹಿತ್ಯದ ಪ್ರಕಟನ ಕಾರ್ಯ ಹೀಗೆ ವಿಜಾಪುರದಲ್ಲಿ ಪ್ರಾರಂಭವಾಗಿ, ಧಾರವಾಡದಲ್ಲಿ ಬೆಳೆದು, ಗದುಗಿನಲ್ಲಿ ಒಂದು ನಿಲುಗಡೆಗೆ ಬರುತ್ತಿದ್ದಂತೆಯೇ, ಈಗ ನಾಲ್ಕನೆಯ ಘಟ್ಟದಲ್ಲಿ 'ಸಮಗ್ರ ವಚನಸಾಹಿತ್ಯದ ಜನಪ್ರಿಯ ಆವೃತ್ತಿ ಪ್ರಕಟನ ಯೋಜನೆ'ಯ ಅಂಗವಾಗಿ, ೧೫ ಸಂಪುಟಗಳು ಕರ್ನಾಟಕ ಸರಕಾರದ ಮೂಲಕ ಪ್ರಕಟವಾಗುತ್ತಲಿವೆ. ಸುಮಾರು ೧೧೦ ಜನ ಪ್ರಕ್ಷಿಪ್ತ ವಚನಕಾರರನ್ನೂ ಪ್ರಕ್ಷಿಪ್ತವಾಗಿರಬಹುದಾದ ಅನೇಕ ವಚನಗಳನ್ನೂ ಕೈಬಿಟ್ಟು ಸಂಯೋಜಿಸಲಾದ ಈ ಹದಿನೈದು ಸಂಪುಟಗಳ ಒಟ್ಟು ಪುಟ ಸುಮಾರು ಹತ್ತು ಸಾವಿರ; ಒಟ್ಟು ವಚನ ಸಂಖ್ಯೆ ಸುಮಾರು ಇಪ್ಪತ್ತು ಸಾವಿರ. ವಚನಸಾಹಿತ್ಯವನ್ನು ಒಮ್ಮೆ ಸಮಗ್ರವಾಗಿ ಹೊರತಂದ ಪ್ರಥಮ ಮಹತ್ವಾಕಾಂಕ್ಷೆಯ ಯೋಜನೆಯಿದು. ಈ ಸಾಹಿತ್ಯದ ಗಡಿಗೆರೆಗಳನ್ನು, ಸಂಖ್ಯಾಬಾಹುಳ್ಯವನ್ನು ವ್ಯವಸ್ಥೆಗೊಳಿಸಿ ಕೊಟ್ಟು, ವಿದ್ವಾಂಸರ ಅಧ್ಯಯನದ ಮುಂದುವರಿಕೆಗೆ ಒಂದು ನಿರ್ದಿಷ್ಟ ಚೌಕಟ್ಟನ್ನು ಒದಗಿಸಿದ ಹಿರಿಮೆ ಈ ಯೋಜನೆಗೆ ಸಲ್ಲುತ್ತದೆ.

ಈ ಯೋಜನೆಯ ಅಂಗವಾಗಿ ಬಸವಣ್ಣನವರ ವಚನ, ಪ್ರಭುದೇವರ ವಚನ, ಚೆನ್ನಬಸವಣ್ಣನವರ ವಚನ, ಸಿದ್ಧರಾಮೇಶ್ವರ ವಚನ, ಶಿವಶರಣೆಯರ ವಚನ - ಹೀಗೆ ಐದು ಸಂಪುಟಗಳು, ಬಸವ ಸಮಕಾಲೀನ ಮಿಕ್ಕ ಶರಣರ ವಚನಗಳ ನಾಲ್ಕು ಸಂಪುಟಗಳು,

---

೧. ಮೊದಲು ಪ್ರಕಟವಾದ ವಚನಕೃತಿ ಅಖಂಡೇಶ್ವರ ವಚನ (೧೮೮೨)ವೆಂದು ಡಾ. ಬಿ. ನಂಜುಂಡಸ್ವಾಮಿ ಅವರ ಅಭಿಪ್ರಾಯ. (ಬಸವಪಥ ೧೬.೬)

೨. ಬಸವಣ್ಣನವರ ಷಟ್ಸ್ಥಲದ ವಚನಗಳು ಪ್ರಥಮ ಸಲ ಬೆಳಕುಕಂಡುದು ೧೮೮೬ರಲ್ಲಿಯೆಂದು ಡಾ. ಬಿ. ನಂಜುಂಡಸ್ವಾಮಿ ಹೇಳುತ್ತಾರೆ. (ಬಸವಪಥ ೧೫-೫ ಪು. ೪೫)

ಬಸವೋತ್ತರ ಕಾಲೀನ ಶರಣರ ವನಚಗಳ ಐದು ಸಂಪುಟಗಳು ಮತ್ತು ಒಂದು ವಚನ ಪರಿಭಾಷಾಕೋಶ - ಹೀಗೆ ಹದಿನೈದು ಸಂಪುಟಗಳು ಬೆಳಕುಕಾಣುತ್ತಲಿವೆ. ಇವುಗಳಲ್ಲಿ ಮೊದಲಿನ ಐದು ಸಂಪುಟಗಳು (ಬಸವಣ್ಣ, ಅಲ್ಲಮಪ್ರಭು, ಚೆನ್ನಬಸವಣ್ಣ, ಸಿದ್ಧರಾಮ, ಶಿವಶರಣೆಯರು) ಈಗಾಗಲೇ ಕರ್ನಾಟಕ ವಿಶ್ವವಿದ್ಯಾಲಯದ ಮೂಲಕ ಪ್ರಕಟವಾಗಿದ್ದವು. ಆ ಬಳಿಕ ಲಭ್ಯವಾದ ನೂರಾರು ಹೊಸ ವಚನಗಳನ್ನು ಸೇರಿಸಿ, ಈ ಐದೂ ಸಂಪುಟಗಳಿಗೆ ಸಮಗ್ರರೂಪ ಕೊಟ್ಟಿದ್ದೇವೆ ಮತ್ತು ಪರಿಷ್ಕರಿಸಿದ್ದೇವೆ.

ಬಸವ ಸಮಕಾಲೀನ ಮಿಕ್ಕ ಶರಣರ ನಾಲ್ಕು ಸಂಪುಟಗಳ ಕೆಲಸ ಈವರೆಗೆ ಸಮರ್ಪಕವಾಗಿ ನಡೆದಿರಲಿಲ್ಲ. ಈ ಶರಣರ ಸಂಖ್ಯೆ, ಇವರ ವಚನಸಂಖ್ಯೆ ಅಸ್ಪಷ್ಟವಾಗಿಯೇ ಉಳಿದಿದ್ದಿತು. ವಚನಗಳೂ ಅಲ್ಲಿಷ್ಟು, ಇಲ್ಲಿಷ್ಟು ಪ್ರಕಟವಾಗಿದ್ದವು. ಒಂದಿಷ್ಟು ಅಪ್ರಕಟಿತ ಸ್ಥಿತಿಯಲ್ಲಿಯೇ ಉಳಿದುಬಿಟ್ಟಿದ್ದವು. ಇವೆಲ್ಲವುಗಳನ್ನು ಸಂಗ್ರಹಿಸಿ, ಪರಿಷ್ಕರಿಸಿ ಈ ನಾಲ್ಕೂ ಸಂಪುಟಗಳಿಗೆ ಸಮಗ್ರ ರೂಪ ಕೊಟ್ಟಿದ್ದೇವೆ. ಒಟ್ಟಿನಲ್ಲಿ ಬಸವಯುಗದ ಈ ಎಲ್ಲ ಒಂಬತ್ತು ಸಂಪುಟಗಳಿಗೆ ಸುಮಾರು ಸಾವಿರದಷ್ಟು ಹೊಸ ವಚನಗಳನ್ನು ಸೇರಿಸಿದ್ದೇವೆ.

ಬಸವೋತ್ತರ ಕಾಲೀನ ಶರಣರ ಸಂಪುಟಗಳ ಕೆಲಸ ಇನ್ನೂ ಅಲಕ್ಷಿತವಾಗಿದ್ದಿತು. ಈವರೆಗೆ ತಿಳಿದುಬಂದಿದ್ದ ವಚನಕಾರರ ಹೊಸ ವಚನಗಳನ್ನು ಶೋಧಿಸುವುದರೊಂದಿಗೆ, ಅನೇಕ ಹೊಸ ವಚನಕಾರರನ್ನೂ ಬೆಳಕಿಗೆ ತಂದಿದ್ದೇವೆ. ಇದರಿಂದಾಗಿ ಬಸವೋತ್ತರಯುಗದ ಶರಣರನ್ನೂ ಅವರ ವಚನಗಳ ವ್ಯಾಪ್ತಿಯನ್ನೂ ಜನತೆಯ ಮುಂದಿಟ್ಟ ಪ್ರಥಮ ಕೀರ್ತಿ ಈ ಐದು ಸಂಪುಟಗಳಿಗೆ ಸಲ್ಲುತ್ತದೆ. ಹೀಗೆ ಬಸವಯುಗ, ಬಸವೋತ್ತರಯುಗಗಳ ವಚನಸಾಹಿತ್ಯಕ್ಕೆ ಸಂಬಂಧಪಟ್ಟ ಎಲ್ಲ ಕೊರತೆಗಳನ್ನು ತುಂಬಿಕೊಡುವ ಒಂದು ಪರಿಪೂರ್ಣ ಯೋಜನೆ ಇದಾಗಿದೆ. ಮೊದಲ ಬಾರಿಗೆ ೧೯ನೆಯ ಶತಮಾನದವರೆಗಿನ ಎಲ್ಲ ಶರಣರ ಎಲ್ಲ ವಚನಗಳನ್ನು ಒಂದೆಡೆ ಸಂಗ್ರಹಿಸಿ, ಒಂದು ಕ್ರಮಕ್ಕೆ ಅಳವಡಿಸಿ, ಸಂಪುಟ ಶ್ರೇಣಿಯಲ್ಲಿ ಹೊರತಂದ ದೊಡ್ಡಪ್ರಯತ್ನ ಇಲ್ಲಿದೆ.

ವಚನಸಾಹಿತ್ಯದ ಪರಿಷ್ಕರಣಕಾರ್ಯ ತುಂಬ ಜಟಿಲವಾದುದು. ೧. ಎಲ್ಲ ಶರಣರ ಎಲ್ಲ ವಚನಗಳನ್ನು ಎಲ್ಲ ಪ್ರಾಚೀನ ಆಕರಗಳಿಂದ ಸಂಗ್ರಹಿಸುವುದು, ೨. ಪ್ರಕ್ಷಿಪ್ತವಾಗಿರಬಹುದಾದ ವಚನಕಾರರನ್ನು, ವಚನಗಳನ್ನು ಕೈಬಿಡುವುದು, ೩. ನಿಜವಚನಗಳ ಪಾಠವನ್ನು ಪರಿಷ್ಕರಿಸುವುದು - ಇದು ಈ ಯೋಜನೆಯ ಉದ್ದೇಶವಾಗಿದೆ. ಈ ಉದ್ದೇಶ ಸಾಧನೆಗಾಗಿ ಎಲ್ಲ ಪ್ರಾಚೀನ ಆಕರಗಳಿಂದ ಅಂದರೆ ಸುಮಾರು ೧೦೮ ಆಕರಗಳಿಂದ ಎಲ್ಲ ವಚನಗಳನ್ನು ಸಂಗ್ರಹಿಸಿ, ಪ್ರತಿಯೊಂದು ವಚನದ ಕೆಳಗೆ ಅದರ ಎಲ್ಲ ಆಕರಗಳನ್ನು ನಮೂದಿಸಿದ 'ವಚನ ಬ್ಯಾಂಕ'ನ್ನು ಅಸ್ತಿತ್ವಕ್ಕೆ ತರಲಾಯಿತು. ಒಂದು ವಚನಕ್ಕೆ ಇರುವ ವಿವಿಧ ಪಾಠಾಂತರ, ರೂಪಾಂತರಗಳ ಸ್ವರೂಪವನ್ನು ಅರ್ಥಮಾಡಿಕೊಳ್ಳಲು, ಮುದ್ರಿಕೆಯ ವ್ಯತ್ಯಾಸವನ್ನು ಗಮನಿಸಲು, ಒಬ್ಬ ವಚನಕಾರನ ಒಟ್ಟು ವಚನಗಳ ಸಂಖ್ಯೆಯನ್ನು ನಿರ್ಧರಿಸಲು, ಕೊನೆಯದಾಗಿ ವಚನದ ನಿಜಪಾಠವನ್ನು ನಿರ್ಣಯಿಸಲು ಈ ಬ್ಯಾಂಕ್ ತುಂಬ ನೆರವಾಯಿತು.

ಇವು ಜನಪ್ರಿಯ ಆವೃತ್ತಿಗಳಾಗಿರುವುದರಿಂದ ಲಭ್ಯವಿರುವ ಪಾಠಾಂತರಗಳಲ್ಲಿ ಯೋಗ್ಯವಾದುದನ್ನು ಸ್ವೀಕರಿಸಿ, ಅನ್ಯಪಾಠಗಳನ್ನು ಅಡಿಯಲ್ಲಿ ನಮೂದಿಸದೆ ಕೈಬಿಟ್ಟಿದ್ದೇವೆ. ಜನಸಾಮಾನ್ಯರ ಅನುಕೂಲತೆಗಾಗಿ ಶಕಟರೇಫೆಗೆ ಬದಲು ರೇಫೆ ಇಟ್ಟುಕೊಂಡಿದ್ದೇವೆ. ಅಭ್ಯಾಸಿಗಳ ಉಪಯೋಗ ದೃಷ್ಟಿಯಿಂದ ಕಠಿಣ ಪದಕೋಶ, ಅಕಾರಾದಿ, ಆಕರಸೂಚಿಗಳನ್ನು ಅನುಬಂಧದಲ್ಲಿ ಕೊಟ್ಟಿದ್ದೇವೆ. ಹೆಚ್ಚಿನದಾಗಿ ಪಾರಿಭಾಷಿಕ ಪದಗಳ ಒಂದು ಸ್ವತಂತ್ರ ಕೋಶವನ್ನೇ ಪ್ರಕಟಿಸಿದ್ದೇವೆ. ಒಟ್ಟಿನಲ್ಲಿ, ಇವು ಜನಪ್ರಿಯ ಆವೃತ್ತಿಗಳಾದರೂ ವಿದ್ವಜ್ಜನಪ್ರಿಯ ಆವೃತ್ತಿಗಳೂ ಆಗಬೇಕೆಂಬ ಆದರ್ಶದಲ್ಲಿ ಈ ಸಂಪುಟಗಳನ್ನು ರೂಪಿಸಲು ಪ್ರಯತ್ನಿಸಿದ್ದೇವೆ.

## ಕೃತಜ್ಞತೆ

ವಿಶ್ವವಿದ್ಯಾಲಯದಂಥ ಶಿಕ್ಷಣ ಸಂಸ್ಥೆಗಳು, ಲಿಂಗಾಯತ ವಿದ್ಯಾಭಿವೃದ್ಧಿ ಸಂಸ್ಥೆಯಂಥ ಸಾರ್ವಜನಿಕ ಸಂಸ್ಥೆಗಳು, ವೀರಶೈವ ಮಠಗಳಂಥ ಧಾರ್ಮಿಕ ಸಂಸ್ಥೆಗಳು, ಡಾ. ಫ. ಗು. ಹಳಕಟ್ಟಿಯವರಂಥ ವಿದ್ವಾಂಸ ವ್ಯಕ್ತಿಗಳು ನಿರಂತರ ದುಡಿದರೂ ವಚನಸಾಹಿತ್ಯ ಪೂರ್ಣಪ್ರಮಾಣದಲ್ಲಿ ಪ್ರಕಟವಾಗಲು ಒಂದುನೂರು ವರ್ಷ ಹಿಡಿದುದು ಅದರ ಗಾತ್ರಬಾಹುಳ್ಯಕ್ಕೆ ಸಾಕ್ಷಿಯಾಗಿದೆ. ನೂರುವರ್ಷ ದುಡಿದು, ಸಾಮಗ್ರಿಯನ್ನು ಪ್ರಕಟಿಸಿದ ಈ ಎಲ್ಲ ವ್ಯಕ್ತಿ-ಸಂಸ್ಥೆಗಳಿಗೆ ನಮ್ಮ ಕೃತಜ್ಞತಾಪೂರ್ವಕ ವಂದನೆಗಳು ಸಲ್ಲುತ್ತವೆ.

ಈ ಯೋಜನೆಯ ಕಾರ್ಯಾಲಯ ಅಸ್ತಿತ್ವಕ್ಕೆ ಬಂದು ಕೆಲಸ ಪ್ರಾರಂಭವಾದದ್ದು ಅಕ್ಟೋಬರ್ ೧೫, ೧೯೮೮ರಂದು. ಹಸ್ತಪ್ರತಿಗಳು ಅಚ್ಚಿಗೆ ಹೋದದ್ದು ೧೬ ಮಾರ್ಚ್ ೧೯೯೦ರಂದು. ಹೀಗೆ ಮೊದಲೇ ಯೋಜಿಸಿದಂತೆ ಎರಡು ವರ್ಷಗಳ ನಿರ್ದಿಷ್ಟ ಅವಧಿಯಲ್ಲಿ ಈ ಕೆಲಸವನ್ನು ಪೂರ್ಣಗೊಳಿಸಿದ್ದೇವೆ. ಪ್ರತಿಯೊಂದು ಹಂತದಲ್ಲಿಯೂ ಈ ಯೋಜನೆ ಸಕ್ರಮವಾಗಿ ಮುನ್ನಡೆಯುವುದಕ್ಕಾಗಿ 'ಸಂಪಾದಕ ಮಂಡಳಿ'ಯ ಸದಸ್ಯರಾದ ಡಾ. ಎಂ. ಚಿದಾನಂದಮೂರ್ತಿ, ಡಾ. ಸಿ. ಪಿ. ಕೃಷ್ಣಕುಮಾರ, ಡಾ. ಎಸ್. ವಿದ್ಯಾಶಂಕರ, ಶ್ರೀ ಎಸ್. ಶಿವಣ್ಣ ಅವರು ಉದ್ದಕ್ಕೂ ಬೆಲೆಯುಳ್ಳ ಸಲಹೆ-ಮಾರ್ಗದರ್ಶನ ನೀಡಿದ್ದಾರೆ. ಡಾ. ಎಚ್. ತಿಪ್ಪೇರುದ್ರಸ್ವಾಮಿ ಅವರು ಆರಂಭದ ಕೆಲವು ತಿಂಗಳು ಸಂಪಾದಕ ಮಂಡಳಿಯ ಸದಸ್ಯರಾಗಿ, ವಿಶ್ವಾಸದಿಂದ ನೆರವಾಗಿದ್ದಾರೆ. ಸಂಪಾದಕ ಮಿತ್ರರಾದ ಡಾ. ಬಿ. ವ್ಹಿ. ಮಲ್ಲಾಪುರ, ಡಾ. ಎಸ್. ವಿದ್ಯಾಶಂಕರ, ಡಾ. ವ್ಹಿ. ಬಿ. ರಾಜೂರ, ಡಾ. ಬಿ. ಆರ್. ಹಿರೇಮಠ, ಶ್ರೀ ಎಸ್. ಶಿವಣ್ಣ ತುಂಬ ಶ್ರಮ-ಶ್ರದ್ಧೆಗಳಿಂದ ಸಂಪಾದನ ಕೆಲಸ ಪೂರೈಸಿದ್ದಾರೆ. ಸಹಾಯಕ ಸಂಶೋಧಕರಾದ ಶ್ರೀಮತಿ ವಿಜಯಶ್ರೀ ಹಿರೇಮಠ, ಶ್ರೀ ವಾಯ್. ಎಂ. ಯಾಕೊಳ್ಳಿ, ಶ್ರೀ ಬಿ. ವ್ಹಿ. ಕೋರಿ ಅವರು ದಣಿವನ್ನು ಲೆಕ್ಕಿಸದೆ ದುಡಿದಿದ್ದಾರೆ. ಇವರೆಲ್ಲರಿಗೆ ನಾವು ಕೃತಜ್ಞರಾಗಿದ್ದೇವೆ.

ಈ ಯೋಜನೆಯನ್ನು ಅನುದಾನ ಮಾಡಿದ ಕರ್ನಾಟಕ ಸರಕಾರದ ಔದಾರ್ಯಕ್ಕೆ ನಮ್ಮ ಅಭಿನಂದನೆಗಳು ಸಲ್ಲುತ್ತವೆ. ಈ ಅವಧಿಯಲ್ಲಿ ಮುಖ್ಯಮಂತ್ರಿಗಳಾಗಿದ್ದ ಮಾನ್ಯ ಶ್ರೀ ರಾಮಕೃಷ್ಣ ಹೆಗಡೆ, ಶ್ರೀ ಎಸ್. ಆರ್. ಬೊಮ್ಮಾಯಿ, ಶ್ರೀ ವೀರೇಂದ್ರ ಪಾಟೀಲ, ಶ್ರೀ ಎಸ್. ಬಂಗಾರಪ್ಪ ಅವರಿಗೂ, ಸಾಹಿತಿಗಳೂ ಸಾಹಿತ್ಯ-ಸಂಸ್ಕೃತಿಗಳ ಗಾಢ ಆಸಕ್ತರೂ

ಆಗಿರುವ ಮುಖ್ಯಮಂತ್ರಿಗಳಾದ ಮಾನ್ಯ ಶ್ರೀ ಎಂ. ವೀರಪ್ಪ ಮೊಯಿಲಿ ಅವರಿಗೂ ಋಣಿಯಾಗಿದ್ದೇವೆ.

ಈ ಯೋಜನೆ ಅಸ್ತಿತ್ವಕ್ಕೆ ಬರುವಲ್ಲಿ ವಿಶೇಷ ಆಸಕ್ತಿ ವಹಿಸಿದವರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಅಂದಿನ ಸಚಿವರಾಗಿದ್ದ ಶ್ರೀ ಎಂ. ಪಿ. ಪ್ರಕಾಶ ಅವರು. ಸಾಹಿತ್ಯ-ಸಂಸ್ಕೃತಿಗಳ ಬಗ್ಗೆ ಅನನ್ಯ ಪ್ರೀತಿ-ಗೌರವ ಬೆಳೆಸಿಕೊಂಡಿರುವ ಶ್ರೀಯುತರಿಗೆ ನಾವು ಕೃತಜ್ಞರಾಗಿದ್ದೇವೆ. ಆಮೇಲೆ ಈ ಇಲಾಖೆಗೆ ಸಚಿವರಾಗಿ ಬಂದ ಶ್ರೀ ಎಂ. ವೀರಪ್ಪ ಮೊಯಿಲಿ, ಶ್ರೀ ಕೆ. ಎಚ್. ರಂಗನಾಥ, ಶ್ರೀ ಎಸ್. ರಮೇಶ್, ಇಂದಿನ ಸಚಿವರಾದ ಮಾನ್ಯ ಶ್ರೀ ಎಚ್. ವಿಶ್ವನಾಥ್ ಅವರಿಗೆ ನಮ್ಮ ಗೌರವಗಳು ಸಲ್ಲುತ್ತವೆ.

ಈ ಪ್ರಸಂಗದಲ್ಲಿ ಆತ್ಮೀಯ ಆಡಳಿತ ನಿರ್ದೇಶನ ಮಾಡಿದ ಕನ್ನಡ ಮತ್ತು ಸಂಸ್ಕೃತಿ ನಿರ್ದೇಶನಾಲಯದ ಅಂದಿನ ನಿರ್ದೇಶಕರಾಗಿದ್ದ ಶ್ರೀ ಐ. ಎಂ. ವಿಠ್ಠಲಮೂರ್ತಿ, ಶ್ರೀ ಬಿ. ಪಾರ್ಥಸಾರಥಿ, ಕಮಿಷನರ್ ಡಾ. ಪಿ. ಎಸ್. ರಾಮಾನುಜಂ, ಇಂದಿನ ಕಮಿಷನರ್‌ರಾದ ಶ್ರೀ ಪಿ. ಎಸ್. ವಿ. ರಾವ್ ಅವರನ್ನೂ ಅಧಿಕ ನಿರ್ದೇಶಕರಾದ ಶ್ರೀ ಕೆ. ದೇವರಸಯ್ಯ, ಉಪನಿರ್ದೇಶಕರಾದ ಶ್ರೀ ಕಾ. ತ. ಚಿಕ್ಕಣ್ಣ ಅವರನ್ನೂ ನೆನೆಯುವುದು ಪ್ರೀತಿಯ ವಿಷಯವಾಗಿದೆ.

ಇಂಥ ಒಂದು ಬೃಹತ್ ಯೋಜನೆಗೆ ಕಾರ್ಯಾಲಯವೊಂದು ಅತ್ಯವಶ್ಯ. ಕರ್ನಾಟಕ ವಿಶ್ವವಿದ್ಯಾಲಯದ ಕನ್ನಡ ಅಧ್ಯಯನ ಪೀಠದಲ್ಲಿ ಈ ಅವಕಾಶ ಕಲ್ಪಿಸಿಕೊಟ್ಟ ಕರ್ನಾಟಕ ವಿಶ್ವವಿದ್ಯಾಲಯದ ಅಂದಿನ ಕುಲಪತಿ ಡಾ. ಜಿ. ಕೆ. ನಾರಾಯಣರೆಡ್ಡಿ, ಇಂದಿನ ಕುಲಪತಿ ಡಾ. ಎಸ್. ರಾಮೇಗೌಡ ಅವರ ಔದಾರ್ಯವನ್ನು, ಪೀಠದ ಮುಖ್ಯಸ್ಥರ ಸಹಕಾರವನ್ನು ಕೃತಜ್ಞತೆಯಿಂದ ನೆನೆಯುತ್ತೇವೆ.

ಇದು ಒಂದು ದೊಡ್ಡ ಯೋಜನೆ. ಇದರ ಸಂಪಾದನೆಯ ಸಮಸ್ಯೆಗಳೂ ದೊಡ್ಡವು. ಪಾಠಾಂತರ, ರೂಪಾಂತರ, ಪ್ರಕ್ಷಿಪ್ತತೆ ಇತ್ಯಾದಿಗಳ ದಾಳಿಗೆ ಗುರಿಯಾಗುತ್ತ ಬಂದ ವ್ಯಾಪಕ ಪ್ರಮಾಣದ ಈ ಸಾಹಿತ್ಯವನ್ನು ಒಂದೆಡೆ ಸಂಗ್ರಹಿಸುವುದು, ಪುನರುಕ್ತಿಗಳನ್ನು ಗುರುತಿಸುವುದು, ಮುದ್ರಿಕೆ ಪಲ್ಲಟಗಳನ್ನು ಸರಿಪಡಿಸುವುದು, ಪ್ರಕ್ಷಿಪ್ತಗಳನ್ನು ದೂರೀಕರಿಸುವುದು, ಕೊನೆಯದಾಗಿ ವಚನಗಳನ್ನು ಶುದ್ಧೀಕರಿಸುವುದು - ಎಂಥವರನ್ನೂ ಧೈರ್ಯಗೆಡಿಸುವ ಕೆಲಸ. ಹೀಗಿದ್ದೂ ವಚನಸಾಹಿತ್ಯದ ಮೇಲಿನ ಗೌರವ, ಕೆಲಸದ ಮೇಲಿನ ಪ್ರೀತಿಗಳು ನಮ್ಮಿಂದ ಈ ಕಾರ್ಯ ಮಾಡಿಸಿವೆ. ನಮ್ಮ ಶಕ್ತಿಗೆ ಮೀರಿ ಉಳಿದಿರಬಹುದಾದ ದೋಷಗಳನ್ನು ಮನ್ನಿಸಬೇಕೆಂದು ಕೋರುತ್ತ, ಎರಡು ವರ್ಷ ರಾತ್ರಿಯನ್ನೂ ಹಗಲುಮಾಡಿ ದುಡಿದು ರೂಪಿಸಿದ ಈ ಹದಿನೈದು ಸಂಪುಟಗಳನ್ನು ಸಹೃದಯಲೋಕಕ್ಕೆ ಅರ್ಪಿಸುತ್ತೇವೆ. 'ಶಿವಶರಣರ ಸಮಗ್ರ ವಚನಸಾಹಿತ್ಯ' ಸುಲಭ ಬೆಲೆಯಲ್ಲಿ ಕನ್ನಡಿಗರ ಮನೆ-ಮನಗಳನ್ನು ಬೆಳಗಲೆಂದು ಹಾರೈಸುತ್ತೇವೆ.

# ದ್ವಿತೀಯ ಆವೃತ್ತಿ

ಸಮಗ್ರ ವಚನಸಾಹಿತ್ಯದ ಜನಪ್ರಿಯ ಆವೃತ್ತಿ ಸಂಪುಟಗಳು ೧೯೯೩ರಲ್ಲಿ ಪ್ರಕಟವಾಗಿ, ಒಂದು ವರ್ಷ ಕಳೆಯುವಷ್ಟರಲ್ಲಿ ಮಾರಾಟವಾದುವು. ಕರ್ನಾಟಕ ಸರಕಾರದ ಗ್ರಂಥಪ್ರಕಟನೆಯ ಇತಿಹಾಸದಲ್ಲಿಯೇ ಈ ಬಗೆಯ ಮಾರಾಟ ಒಂದು ದಾಖಲೆ. ಜನತೆಯ ಅಪಾರ ಬೇಡಿಕೆಯನ್ನು ಗಮನಿಸಿ, ಈಗ ಪರಿಷ್ಕೃತ ದ್ವಿತೀಯ ಆವೃತ್ತಿಯನ್ನು ಪ್ರಕಟಿಸುತ್ತಿದ್ದೇವೆ. ಇತ್ತೀಚೆಗೆ ಲಭ್ಯವಾದ ಸುಮಾರು ಒಂದು ಸಾವಿರ ಹೊಸವಚನಗಳನ್ನು ಸೇರಿಸುವ, ಮೊದಲ ಆವೃತ್ತಿಯ ವಚನಪಾಠವನ್ನು ಮತ್ತೆ ಪರಿಷ್ಕರಿಸುವ ಮೂಲಕ ಮೊದಲಿನ ೧೪ ಸಂಪುಟಗಳನ್ನು ಸಮಗ್ರವಾಗಿ ಮತ್ತೆ ರೂಪಿಸಿದ್ದೇವೆ. ೧೫ನೆಯ ಸಂಪುಟ (ಪರಿಭಾಷಾಕೋಶ) ವನ್ನು ಹೊಸದಾಗಿ ಸಿದ್ಧಪಡಿಸಿದ್ದೇವೆ. ಹೊಸ ವಿಚಾರ, ಶೋಧಗಳ ಬೆಳಕಿನಲ್ಲಿ ಸಂಪಾದಕೀಯ, ಪ್ರಸ್ತಾಪವನೆಗಳನ್ನು ಸೂಕ್ತ ರೀತಿಯಲ್ಲಿ ಪರಿಷ್ಕರಿಸಿದ್ದೇವೆ.

ಈ ಆವೃತ್ತಿ ಬೆಳಕು ಕಾಣಲು ವಿಶೇಷ ಆಸಕ್ತಿ ವಹಿಸಿದ ನಮ್ಮ ರಾಜ್ಯದ ಮುಖ್ಯಮಂತ್ರಿಗಳಾದ ಮಾನ್ಯ ಶ್ರೀ ಎಸ್. ಎಂ. ಕೃಷ್ಣ ಅವರಿಗೂ, ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಸಚಿವರಾದ ಮಾನ್ಯ ಶ್ರೀಮತಿ ರಾಣಿ ಸತೀಶ್ ಅವರಿಗೂ ನಾವು ಋಣಿಯಾಗಿದ್ದೇವೆ. ಈ ಕೆಲಸ ನಿರ್ದಿಷ್ಟ ಕಾಲಾವಧಿಯಲ್ಲಿ ಪೂರ್ಣಗೊಳ್ಳುವಂತೆ ನೋಡಿಕೊಂಡ ಕನ್ನಡ ಸಂಸ್ಕೃತಿ ನಿರ್ದೇಶನಾಲಯದ ನಿರ್ದೇಶಕರಾದ ಶ್ರೀ ಕೆ. ಸಿ. ರಾಮಮೂರ್ತಿ ಅವರಿಗೂ ಅವರ ಸಿಬ್ಬಂದಿ ವರ್ಗಕ್ಕೂ, ಮಾರ್ಗದರ್ಶನ ಮಾಡಿ ಸಂಪುಟಗಳ ಉತ್ತಮಿಕೆ ಕಾರಣರಾದ ಸಂಪಾದಕ ಮಂಡಲದ ಸದಸ್ಯರಿಗೂ, ಸಂಸ್ಕೃತ ಶ್ಲೋಕಗಳನ್ನು ಪರಿಷ್ಕರಿಸಿಕೊಟ್ಟ ಮೈಸೂರಿನ ಪೂಜ್ಯ ಶ್ರೀ ಇಮ್ಮಡಿ ಶಿವಬಸವಸ್ವಾಮಿಗಳು ಕುಂದೂರುಮಠ ಅವರಿಗೂ, ೧೫ನೆಯ ಪರಿಭಾಷಾ ಸಂಪುಟವನ್ನು ಹೊಸದಾಗಿ ರೂಪಿಸಿಕೊಟ್ಟ ಡಾ. ಎನ್. ಜಿ. ಮಹಾದೇವಪ್ಪ ಅವರಿಗೂ ನಮ್ಮ ವಂದನೆಗಳು ಸಲ್ಲುತ್ತವೆ. ಹತ್ತು ಸಾವಿರ ಪುಟಗಳ, ಹದಿನೈದು ಸಂಪುಟಗಳ ಪ್ರಕಟನೆ ಸುಲಭದ ಕೆಲಸವೇನಲ್ಲ. ಸಾಹಿತ್ಯದ ಮೇಲಿನ, ಅದರಲ್ಲಿಯೂ ವಚನಸಾಹಿತ್ಯದ ಮೇಲಿನ ಪ್ರೀತಿ ಕಾರಣವಾಗಿ ಪುಸ್ತಕ ಪ್ರಾಧಿಕಾರದ ಮೂಲಕ ಪ್ರಕಟಿಸಿದ ಅಧ್ಯಕ್ಷರಾದ ಪ್ರೊ. ಮಲ್ಲೇಪುರಂ ಜಿ. ವೆಂಕಟೇಶ ಅವರಿಗೆ ನಾವು ಋಣಿಯಾಗಿದ್ದೇವೆ.

ಮೊದಲ ಆವೃತ್ತಿಯಲ್ಲಿ ಉಳಿದುಕೊಂಡಿದ್ದ ಕೊರತೆ, ದೋಷಗಳನ್ನು ಕಷ್ಟಪಟ್ಟು ಹುಡುಕಿ, ನಮಗೆ ಪೂರೈಸಿದ ತುಮಕೂರಿನ ಶ್ರೀ ಎಂ. ಚಂದ್ರಪ್ಪ ಅವರಿಗೂ, ಬೆಂಗಳೂರಿನ ಶ್ರೀ ಎಸ್. ಶಿವಣ್ಣ ಅವರಿಗೂ ನಾವು ಕೃತಜ್ಞರಾಗಿದ್ದೇವೆ.

■■

*

# ಪ್ರಸ್ತಾವನೆ

ಸಕಲಜೀವಾತ್ಮರಿಗೆ ಲೇಸನೆ ಬಯಸುವ ಮಹಾಕ್ರಾಂತಿಯೊಂದು ಕರ್ನಾಟಕದ ಕಲ್ಯಾಣದಲ್ಲಿ ಬಸವಣ್ಣನವರ ನೇತೃತ್ವದಲ್ಲಿ ನಡೆದುಹೋಯಿತು. ೧೨ನೆಯ ಶತಮಾನದಲ್ಲಿ ಜರುಗಿದ ಈ ಕ್ರಾಂತಿಯ ಗುರಿ ಇಡೀ ಮಾನವ ಜನಾಂಗದ ಸಮುದ್ಧರಣ. ಹೀಗಾಗಿ ಅದು ಸಮಾಜದ ವಿವಿಧ ಸ್ತರಗಳನ್ನು ಮುಟ್ಟಿತು. ವಿವಿಧ ವರ್ಗಗಳನ್ನು ತನ್ನ ತೋಳ ತೆಕ್ಕೆಯಲ್ಲಿ ಅಪ್ಪಿಕೊಂಡಿತು. ಸಮಾಜದ ವಿವಿಧ ಕ್ಷೇತ್ರಗಳಲ್ಲಿ ಒಂದು ಅದ್ಭುತ ಪರಿವರ್ತನೆ ತರುವುದನ್ನೇ ತನ್ನ ಉದ್ದೇಶವಾಗಿರಿಸಿಕೊಂಡಿದ್ದ ಈ ಅಭೂತಪೂರ್ವ ಕ್ರಾಂತಿಯ ನೇತಾರರಾದ ಬಸವಣ್ಣನವರ ಹೆಗಲಿಗೆ ಹೆಗಲು ಕೊಟ್ಟು ದುಡಿದ ಶರಣರಲ್ಲಿ ಅಲ್ಲಮಪ್ರಭುವಿನದು ಬಹುದೊಡ್ಡ ಹೆಸರು. ಆ ಕ್ರಾಂತಿಗೆ ಒಂದು ನಿರ್ಣಾಯಕ ಸ್ವರೂಪ ಕೊಡುವಲ್ಲಿ ಅನುಭಾವಿ ಪ್ರಭುದೇವರು ವಹಿಸಿದ ಪಾತ್ರ ತುಂಬಾ ಮಹತ್ವದ್ದು. ಯೋಗ್ಯತೆಯ ದೃಷ್ಟಿಯಿಂದ ವಿಶ್ವಮಹತಿ ಪಡೆಯಬಲ್ಲ ಒಬ್ಬ ಮಹಾವ್ಯಕ್ತಿಯಾದ ಪ್ರಭುದೇವರ ಜೀವನ ಚರಿತ್ರೆಯ ಬಗ್ಗೆ ಬಹಳ ಕಡಿಮೆ ತಿಳಿದಿರುವದು ಚೋದ್ಯಕ್ಕೆ ಚೋದ್ಯವಾದರೂ ನಿಜ.

ಅಲ್ಲಮಪ್ರಭುವಿನ ಮೇರುಸದೃಶ ವ್ಯಕ್ತಿತ್ವಕ್ಕೆ ಮಾರುಹೋದ ಕನ್ನಡ ಕವಿಗಳು ಅವನ ಚರಿತ್ರೆಯನ್ನು ತಮ್ಮ ದೃಷ್ಟಿ–ಧ್ಯೇಯಗಳಿಗನುಸಾರವಾಗಿ ಬೇರೆ ಬೇರೆಯಾಗಿ ನಿರೂಪಿಸಿದ್ದಾರೆ. ಅದರಲ್ಲಿ ನಾವು ಮುಖ್ಯವಾಗಿ ಎರಡು ಸಂಪ್ರದಾಯಗಳನ್ನು ಗುರುತಿಸಬಹುದಾಗಿದೆ. ಒಂದು: ಹರಿಹರನ ಸಂಪ್ರದಾಯ. ಇನ್ನೊಂದು: ಚಾಮರಸನ ಸಂಪ್ರದಾಯ. ಈ ಸಂಪ್ರದಾಯಗಳಲ್ಲಿ ಯಾವೊಂದನ್ನೂ ಸಂಪೂರ್ಣವಾಗಿ ಚಾರಿತ್ರಿಕ ಪ್ರಮಾಣವೆಂದು ತಿಳಿಯುವಂತಿಲ್ಲ. ಆದರೂ ಕೆಲಮಟ್ಟಿಗೆ ಇವು ಚಾರಿತ್ರಿಕ ಅಂಶಗಳನ್ನು ಒಳಗೊಂಡಿವೆ. ಸ್ವತಃ ಪ್ರಭುದೇವನ ವಚನಗಳು ಕೊಡುವ ಅವನ ವ್ಯಕ್ತಿತ್ವದ ವಿವರಗಳ ಹಿನ್ನೆಲೆಯಲ್ಲಿ, ಈ ಕೃತಿಗಳನ್ನು ವಿವೇಚನಾತ್ಮಕವಾಗಿ ಪರಿಶೀಲಿಸಿ, ಪ್ರಭುದೇವನ ಜೀವನ ಚರಿತ್ರೆಯ ಕೆಲವು ಮುಖ್ಯಾಂಶಗಳನ್ನು ತಿಳಿದುಕೊಳ್ಳಲು ಸಾಧ್ಯವಿದೆ.

ಅಲ್ಲಮ ಹುಟ್ಟಿದ್ದು, ಈಗ ಶಿವಮೊಗ್ಗ ಜಿಲ್ಲೆಯ ಶಿಕಾರಿಪುರ ತಾಲೂಕಿನಲ್ಲಿ ಒಂದು ಚಿಕ್ಕ ಹಳ್ಳಿಯಾಗಿರುವ ಬಳ್ಳಿಗಾವಿಯಲ್ಲಿ. ಹನ್ನೆರಡನೆಯ ಶತಮಾನದಲ್ಲಿ ಇದು 'ಬನವಸೆ ಹನ್ನೆರಡುಸಾವಿರ' ಎಂಬ ಒಂದು ದೊಡ್ಡ ಆಡಳಿತ ವಿಭಾಗದ ಮುಖ್ಯಸ್ಥಳವಾಗಿತ್ತು, ಕಾಳಾಮುಖಶೈವರ ಕೇಂದ್ರಸ್ಥಾನವಾಗಿತ್ತು. ಅಲ್ಲಮನ ತಂದೆಯ ಹೆಸರನ್ನು ಹರಿಹರ ಹೇಳಿಲ್ಲ. ಆದರೆ ಅವನು ನಾಗವಾಸಾಧಿಪತಿಯಾಗಿದ್ದನೆಂಬ ಸೂಚನೆಯನ್ನು ಕೊಡುತ್ತಾನೆ. ಚಾಮರಸನ ಪ್ರಕಾರ ಅಲ್ಲಮಪ್ರಭುವಿನ ತಂದೆ-ತಾಯಿಗಳ ಹೆಸರು ನಿರಹಂಕಾರ-ಸುಜ್ಞಾನಿ. ಅಲ್ಲಮನ ಬಾಲ್ಯಜೀವನದ ಬಗ್ಗೆ ಹೆಚ್ಚಿನ

ವಿವರಗಳು ತಿಳಿದುಬರುವುದಿಲ್ಲ. ದೇವಸ್ಥಾನದಲ್ಲಿ ಮದ್ದಳೆ ಸೇವೆ ಸಲ್ಲಿಸುತ್ತಿದ್ದ ಅವನು ಪ್ರಾಯಕ್ಕೆ ಬಂದಾಗ ಮದ್ದಳೆ ನುಡಿಸುವ ಕಲೆಯಲ್ಲಿ ತುಂಬಾ ಪ್ರಾವೀಣ್ಯ ಪಡೆದುದನ್ನು ಎರಡೂ ಸಂಪ್ರದಾಯಗಳು ಒಪ್ಪಿಕೊಳ್ಳುತ್ತವೆ. ಆ ಕಲಾಪ್ರದರ್ಶನದಿಂದಾಗಿಯೇ ಅವನ ಜೀವನದಲ್ಲಿ ಹೆಣ್ಣೊಂದರ ಪ್ರವೇಶವಾಗುತ್ತದೆ. ಹರಿಹರನ ಪ್ರಕಾರ ಆ ಹೆಣ್ಣು ಕಾಮಲತೆಯಾದರೆ. ಚಾಮರಸನ ಪ್ರಕಾರ ಅವಳು ಮಾಯಾದೇವಿ. ಅಲ್ಲಮನ ಸುಖಮಯ ದಾಂಪತ್ಯಜೀವನದಲ್ಲಿ ಕಾಮಲತೆಯ ಮರಣದಿಂದಾಗಿ ಒಂದು ಹೊಸ ತಿರುವು ಕಾಣಿಸಿಕೊಳ್ಳುತ್ತದೆಂದು ಹರಿಹರ ಹೇಳಿದರೆ. ತನ್ನನ್ನು ಕೂಡಿಕೊಳ್ಳಲು ಹಲವಂದದಿಂದ ಪ್ರಯತ್ನಿಸುತ್ತಿದ್ದ ಮಾಯಾದೇವಿಯನ್ನು ತಿರಸ್ಕರಿಸಿ ಮಾಯಾಕೋಲಾಹಲನಾದಾಗ ಅಲ್ಲಮನ ಜೀವನ ಹೊಸ ದಿಕ್ಕನ್ನು ಹಿಡಿಯಿತೆಂದು ಚಾಮರಸ ಪ್ರತಿಪಾದಿಸುತ್ತಾನೆ.

ಅನಿಮಿಷದೇವ ಅಲ್ಲಮನ ಗುರು. ಹರಿಹರ. ಚಾಮರಸ. ಶೂನ್ಯಸಂಪಾದನಾಕಾರರು ಇದನ್ನು ಒಪ್ಪಿಕೊಳ್ಳುತ್ತಾರೆ. ಸ್ವತಃ ಅಲ್ಲಮನ ವಚನಗಳು ಇದಕ್ಕೆ ಆಧಾರ ಒದಗಿಸುತ್ತವೆ. ಅಲ್ಲಮನ ಜೀವನದಲ್ಲಿ ಅನಿಮಿಷ ಗುರುವಿನ ಸಂದರ್ಶನ ಒಂದು ತುಂಬಾ ಪ್ರಮುಖವಾದ ಘಟ್ಟ. ಇಲ್ಲಿಂದ ಮುಂದೆ ಅವನು ನಡೆಸಿದ ಸಾಧನೆ ಅವನನ್ನು ಒಬ್ಬ ದೊಡ್ಡ ಅನುಭಾವಿಯನ್ನಾಗಿ ಮಾಡುವ ಜೊತೆಗೆ. ಬಸವಣ್ಣನವರು ಕೈಗೆತ್ತಿಕೊಂಡ ಸರ್ವವ್ಯಾಪಿ ಕ್ರಾಂತಿಯ ವಿವಿಧ ಹಂತಗಳಲ್ಲಿ –ಮುಖ್ಯವಾಗಿ ಅಧ್ಯಾತ್ಮಕ್ಕೆ ಸಂಬಂಧಿಸಿದಂತೆ – ಮಾರ್ಗದರ್ಶನ ನೀಡಿದ ಕ್ಷಮತೆಯುಳ್ಳದ್ದಾಗಿದೆ.

ಅಪ್ರತಿಮ ಅನುಭಾವಿಯಾಗಿದ್ದ ಪ್ರಭುದೇವ ತನ್ನಷ್ಟಕ್ಕೆ ತಾನು ಎಲ್ಲಿಯೋ ಗುಹಾವಾಸಿಯಾಗಿದ್ದು. ತನ್ನೊಬ್ಬನ ಉದ್ಧಾರವನ್ನು ಮಾತ್ರ ಬಯಸದೆ. ಲೋಕದ ಇತರ ಸಾಧಕರ ಹಾಗೂ ಜನಸಾಮಾನ್ಯರ ಬಗ್ಗೆ ಕಾಳಜಿವಹಿಸಿ. ಅವರತ್ತ ಗಮನ ಹರಿಸಿದುದು ಆ ಕಾಲದ ಉಳಿದ ಯೋಗಸಿದ್ಧರಿಂದ ಅವನನ್ನು ವಿಶಿಷ್ಟವಾಗಿಸುತ್ತದೆ. ಪ್ರಭುದೇವನಲ್ಲಿ ಕಂಡುಬರುವ ಇನ್ನೊಂದು ವಿಶೇಷತೆಯೆಂದರೆ ಸ್ವತಃ ತಾನೇ ಸಾಧಕರನ್ನು ಹುಡುಕಿಕೊಂಡು ಹೋಗಿ. ಅವರಲ್ಲಿದ್ದ ಓರೆಕೋರೆಗಳನ್ನು ತಿದ್ದಿ. ಕುಂದುಕೊರತೆಗಳನ್ನು ನೀಗಿಸಿ. ಅವರ ಸಾಧನೆ ಸಿದ್ಧಿಗಳನ್ನು ಪ್ರಶಂಸಿಸಿ ಮಾರ್ಗದರ್ಶನ ನೀಡಿದುದು. ವೀರಶೈವ ನಿರಂಜನ ಜಂಗಮತತ್ತ್ವಕ್ಕೆ ಪ್ರಭುದೇವನ ಜೀವನವೇ ಆದರ್ಶವೆಂಬುದರಲ್ಲಿ ಸಂದೇಹವಿಲ್ಲ.

ದೀನ-ದಲಿತರನ್ನು ಸಂತೈಸುವ. ಅಜ್ಞಾನಿಗಳನ್ನು ಎಚ್ಚರಿಸುವ. ಅಧ್ಯಾತ್ಮ ಸಾಧನೆಯಲ್ಲಿ ತೊಡಗಿರುವ ಸಾಧಕರಿಗೆ ಸರಿಯಾದ ಮಾರ್ಗ ತೋರಿಸುವ ಲೋಕೋಪಕಾರದ ಕಾರ್ಯದಲ್ಲಿ ತನ್ನನ್ನು ತಾನು ತೊಡಗಿಸಿಕೊಂಡು. ಲೋಕಸಂಚಾರಿಯಾದ ಪ್ರಭುದೇವನಿಂದ ಉಪಕೃತರಾದವರು ಹಲವಾರು ಜನ. ಅವರಲ್ಲಿ ಗೊಗ್ಗಯ್ಯ. ಮುಕ್ತಾಯಕ್ಕ. ಸಿದ್ಧರಾಮ. ಗೋರಕ್ಷ ಮೊದಲಾದ ಕೆಲವೇ ಕೆಲವು ಜನ ಪ್ರಮುಖರ ವಿಷಯ ಕಾವ್ಯಗಳಲ್ಲಿ ಬರುತ್ತದೆ.

ಬಸವಣ್ಣನವರು ಕೈಗೆತ್ತಿಕೊಂಡ ಮಹಾ ಆಂದೋಲನದ ಬಗ್ಗೆ ಪ್ರಭುದೇವನಿಗೆ ತುಂಬಾ ಕುತೂಹಲ. ಮನಸ್ಸು ತಡೆಯದೆ ಸಿದ್ಧರಾಮನೊಡಗೂಡಿ ಕಲ್ಯಾಣಕ್ಕೆ ಬಂದು ಅಲ್ಲಿ ಕೆಲಕಾಲವಿದ್ದ. ವೀರಶೈವತತ್ತ್ವದ ಬಗ್ಗೆ, ತತ್ತ್ವ-ತತ್ತ್ವಗಳಲ್ಲಿ ಸಮನ್ವಯ ಸಾಧಿಸುವ ಬಗ್ಗೆ ಹಾಗೂ ಆದರ್ಶ ಸಮಾಜರಚನೆಯ ಬಗ್ಗೆ ಅನುಭವಮಂಟಪದಲ್ಲಿ ನಡೆಯುತ್ತಿದ್ದ ಗೋಷ್ಠಿಗಳಲ್ಲಿ ಕೇಂದ್ರವ್ಯಕ್ತಿಯಾಗಿದ್ದು ಮಾರ್ಗದರ್ಶನ ನೀಡಿದ. ಬಸವಣ್ಣನವರು ಯೋಜಿಸಿದ ಆಂದೋಲನಕ್ಕೆ ತನ್ನ ಪೂರ್ಣಬೆಂಬಲವಿತ್ತ. ಕಲ್ಯಾಣಕ್ಕೆ ಬಂದ ಮಹಾದೇವಿಯಕ್ಕನನ್ನು ವಿವಿಧ ಬಗೆಯ ಪ್ರಶ್ನೆ ಹಾಕುವ ಮೂಲಕ ಪರೀಕ್ಷಿಸಿ, ಅವಳ ವ್ಯಕ್ತಿತ್ವದ ಹಿರಿಮೆ-ಗರಿಮೆಗಳನ್ನು ಶಿವಶರಣರಿಗೆ ಪರಿಚಯಿಸಿದ. ಪ್ರಭುದೇವನಿಂದಾಗಿ ಸಿದ್ಧರಾಮನಂತಹ ಅತ್ಯಂತ ಪ್ರಭಾವಶಾಲಿ ವ್ಯಕ್ತಿ ಬಸವಣ್ಣನವರ ಕಾರ್ಯಕ್ಷೇತ್ರವನ್ನು ಪ್ರವೇಶಿಸುವಂತಾಗಿ, ಬಸವಣ್ಣನವರ ಆಂದೋಲನಕ್ಕೆ ಒಂದು ಬಗೆಯ ಹೊಸಶಕ್ತಿ, ಹೊಸಚೇತನ ಬಂದಿತೆಂಬುದನ್ನು ಮರೆಯಲಾಗದು.

ಬಸವಣ್ಣನವರ ಕ್ರಾಂತಿಕಾರಕ ವಿಚಾರಗಳನ್ನು ಸಂಪ್ರದಾಯಬದ್ಧ ಸಮಾಜ ಹಾಗೂ ರಾಜಸತ್ತೆ ಅರಗಿಸಿಕೊಳ್ಳಲಾರದೆ ಹೋಯಿತು. ನಡೆಯಬಾರದುದು ನಡೆದುಹೋಯಿತು. ಶರಣರೆಲ್ಲ ಕಲ್ಯಾಣವನ್ನು ಬಿಟ್ಟು ಚದುರಬೇಕಾಯಿತು. ಆ ಸಂದರ್ಭದಲ್ಲಿ ಪ್ರಭುದೇವ ಕಲ್ಯಾಣದಲ್ಲಿದ್ದ ಬಗ್ಗೆ ತಿಳಿಯದು. ಪ್ರಾಯಶಃ ಮುಂದಣ ಭೀಕರ ಪರಿಣಾಮವನ್ನರಿತ ಪ್ರಭುದೇವ ಶರಣರಿಗೆ ಎಚ್ಚರಿಕೆಯನ್ನಿತ್ತು, ತಾನೂ ಕಲ್ಯಾಣವನ್ನು ಬಿಟ್ಟಂತೆ ತೋರುತ್ತದೆ.

ಪ್ರಭುದೇವ ತನ್ನ ಕೊನೆಯ ದಿನಗಳನ್ನು ಶ್ರೀಶೈಲದಲ್ಲಿ ಕಳೆದನೆಂದು ಸಾಮಾನ್ಯವಾಗಿ ಎಲ್ಲ ಕೃತಿಗಳು ಒಂದಿಲ್ಲ ಒಂದು ರೀತಿಯಲ್ಲಿ ಸೂಚಿಸುತ್ತವೆ. ಇದು ಅಲ್ಲಮನು ಅಲ್ಲಮಪ್ರಭುವಾದ, ಪ್ರಭುಲಿಂಗವಾದ ಸ್ಥೂಲಕಥೆ.

ಅಲ್ಲಮಪ್ರಭುವಿನ ವಚನಗಳ ವಿಶೇಷತೆಯನ್ನು ಕುರಿತು ಇಲ್ಲಿ ಒಂದೆರಡು ಮಾತು ಹೇಳಬೇಕು. ಅವನ ವಚನಗಳಲ್ಲಿ ಕಂಡುಬರುವ ಪ್ರಖರ ವೈಚಾರಿಕತೆ, ಯೌಗಿಕ ನಿಲುವು ಮತ್ತು ಆಧ್ಯಾತ್ಮಿಕ ಔನ್ನತ್ಯಗಳು ಅಚ್ಚರಿಯನ್ನುಂಟು ಮಾಡುವಂತಹವು. ಆದರೆ ಮಾನಸಿಕ ತುಮುಲವನ್ನು ಪ್ರತಿಬಿಂಬಿಸುವ ವಚನಗಳು ಪ್ರಭುದೇವನಲ್ಲಿ ಬಹಳ ಕಡಮೆ. ಅದಕ್ಕೆ ಕಾರಣ ಮಾನಸಿಕ ಅಸ್ವಾಸ್ಥ್ಯವನ್ನು ಇಲ್ಲವಾಗಿಸಿಕೊಂಡ ಮೇಲೆಯೇ ಅವನು ಹೆಚ್ಚು ವಚನಗಳನ್ನು ಬರೆದುದಾಗಿರಬೇಕು.

"ಎನ್ನ ಮನದ ಕೊನೆಯ ಮೊನೆಯ ಮೇಲೆ
ಅಂಗವಿಲ್ಲದ ರೂಪನ ಕಂಡು ಮರುಳಾದೆನವ್ವಾ
ಆತನ ಕಂಡು ಬೆರಗಾದೆನವ್ವಾ."

ಇಂತಹ ಸತಿ-ಪತಿ ಭಾವದ ವಚನಗಳೂ ಅಲ್ಲಮನಲ್ಲಿ ವಿರಳ. ಸಾಮಾಜಿಕ ವಿಡಂಬನೆಯನ್ನೊಳಗೊಂಡ "ಕಲ್ಲ ಮನೆಯ ಮಾಡಿ, ಕಲ್ಲ ದೇವರ ಮಾಡಿ", "ಕೈಯಲ್ಲಿ ಕರಸ್ಥಲ, ಮನದಲ್ಲಿ ಪರಸ್ಥಲ, ತನುವೆಲ್ಲ ಮಹಿಸ್ಥಲ" – ಇಂತಹ ವಚನಗಳು ಅಲ್ಲಮನಲ್ಲಿ ಸಾಕಷ್ಟು ಬಂದಿವೆ.

"ಕೊಟ್ಟ ಕುದುರೆಯನೇರಲರಿಯದೆ", "ಸುಖವಿಲ್ಲ ಸೂಳೆಗೆ, ಪಥವಿಲ್ಲ ಶೀಲಕ್ಕೆ", "ಎತ್ತಣ ಮಾಮರ ಎತ್ತಣ ಕೋಗಿಲೆ" – ಇಂತಹ ಸರಳ ವಚನಗಳಲ್ಲಿ ಕೂಡ ಪ್ರಭುದೇವನ ವೈಚಾರಿಕತೆ ಎದ್ದು ಕಾಣುತ್ತದೆ.

ಆಧ್ಯಾತ್ಮಿಕ ಅನುಭವ ಹಾಗೂ ಯೌಗಿಕ ನಿಲುವನ್ನು ಅಲ್ಲಮಪ್ರಭುದೇವ ಬೆಡಗಿನ ಮೂಲಕ ಅಭಿವ್ಯಕ್ತಿಪಡಿಸಿರುವುದೇ ಹೆಚ್ಚು. ಸಾಮಾನ್ಯವಾಗಿ ಎಲ್ಲ ಶರಣರು ಬೆಡಗಿನ ವಚನಗಳನ್ನು ಬರೆದಿದ್ದಾರೆ. ಆದರೆ ಅಲ್ಲಮಪ್ರಭುವಿನಷ್ಟು ಹೆಚ್ಚಿನ ಸಂಖ್ಯೆಯಲ್ಲಿ ಯಾರೂ ಬೆಡಗಿನ ವಚನಗಳನ್ನು ಬರೆದಿಲ್ಲ. ಕೇವಲ ಸಂಖ್ಯೆಯಿಂದ ಮಾತ್ರವಲ್ಲ, ಗುಣದ ದೃಷ್ಟಿಯಿಂದಲೂ ಪ್ರಭುದೇವನ ಬೆಡಗಿನ ವಚನಗಳಿಗೆ ಅದ್ವಿತೀಯ ಸ್ಥಾನವಿದೆ. ಇಂತಹ ಅವನ ಬೆಡಗಿನ ವಚನಗಳಿಂದಾಗಿ, 'ಬೆಡಗಿನ ವಚನಪದ್ಧತಿ'ಗೆ ಒಂದು ಹೊಸ ತೇಜಸ್ಸು, ಹೊಸ ಕಾಂತಿ ಬಂದಿದೆ. ಪ್ರಭುದೇವನ ಬೆಡಗಿನ ವಚನಗಳು ಕೇವಲ ಬುದ್ಧಿಯ ಚಮತ್ಕಾರಗಳಾಗಿರದೆ, ಆಂತರಿಕ ಅನುಭವವನ್ನು ಗರ್ಭೀಕರಿಸಿಕೊಂಡಿರುವ ಕಲಾತ್ಮಕ ಸೃಷ್ಟಿಯ ಕಾವ್ಯಪ್ರತಿಮೆಗಳಾಗಿವೆ. ಇಂತಹ ಪ್ರತಿಮೆಗಳ ರಚನೆಯಲ್ಲಿ ಪ್ರಭುದೇವ ತಂದಿರುವ ವೈವಿಧ್ಯ ಮತ್ತು ತೋರಿರುವ ಪ್ರಯೋಗಶೀಲತೆಗಳು ಆಧುನಿಕರ ಮೆಚ್ಚುಗೆಗೂ ಪಾತ್ರವಾಗಬಲ್ಲವು. ಆದರೆ ಅವನ ವಚನಗಳಲ್ಲಿರುವ ಬೆಡಗನ್ನು ಒಡೆದು ಅರ್ಥಯಿಸಿಕೊಂಡು ಆನಂದಿಸುವುದು ಸುಲಭದ ಕೆಲಸವಲ್ಲ. ಆದುದರಿಂದಲೇ ಅವನ ವಚನಗಳಿಗೆ ಮಹಾಲಿಂಗದೇವನಂತಹರು ಟೀಕೆ, ವ್ಯಾಖ್ಯಾನಗಳನ್ನು ಬರೆದಿದ್ದಾರೆ. ಪ್ರಭುದೇವನ ವಚನಗಳಿಗೆ ಟೀಕೆ ಬರೆಯುವ ಮೂಲಕವೇ ವೀರಶೈವ ಟೀಕಾಸಾಹಿತ್ಯಕ್ಕೆ ಶ್ರೀಕಾರ ಬಿದ್ದಂತೆ ತೋರುತ್ತದೆ. ಇದು ಪ್ರಭುದೇವನ ವಚನಗಳಿಗೆ ಅಂದಿನವರು ಕೊಟ್ಟಿದ್ದ ಮಹತ್ವ ಮತ್ತು ಅವು ಎಲ್ಲರಿಗೂ ತಿಳಿಯುವಂತಾಗಬೇಕೆಂಬ ಅವರ ಬಯಕೆಯನ್ನು ಸೂಚಿಸುತ್ತವೆ. ಒಟ್ಟಿನಲ್ಲಿ ಬೆಡಗಿನ ವಚನಗಳಿಗೆ ಪ್ರಭುದೇವನ ಕಾಣಿಕೆ ತುಂಬಾ ಮೌಲಿಕವಾದುದು. ಈತನ ಇಂತಹ ವಚನಗಳ ರಚನೆಯಿಂದಾಗಿ ಮೇಲೆ ಹೇಳಿದಂತೆ ಬೆಡಗಿನ 'ವಚನ ರಚನಾಪದ್ಧತಿ'ಗೆ ಒಂದು ಶಕ್ತಿ ಬಂತು, ಒಂದು ದಿಕ್ಕು ದೊರೆಯಿತು.

ಅಲ್ಲಮನದು ಭಾವುಕವಲ್ಲ-ದ ವೈಚಾರಿಕ ದೃಷ್ಟಿ. ಧಾರ್ಮಿಕ ಆಚರಣೆಗಳು ವಿಚಾರಶೀಲತೆಯನ್ನು ಕಳೆದುಕೊಂಡು ಯಾಂತ್ರಿಕವಾದಾಗ ಅವು ಸಂಪೂರ್ಣ ಅನುಪಯುಕ್ತವಾಗುತ್ತವೆಂಬ ಅಭಿಪ್ರಾಯ ಅಲ್ಲಮನದು. ಆಚಾರ-ವಿಚಾರಗಳ ಸಮನ್ವಯವೇ ಶರಣ ಧರ್ಮದ ತಳಹದಿ. "ಅಲ್ಲಮಪ್ರಭು ಅದನ್ನು ಇನ್ನೂ ಗಟ್ಟಿಗೊಳಿಸಿ, ಆದರ ಮೇಲೂ ವಿಚಾರದ ಸೌಧವನ್ನು ನಿರ್ಮಿಸಿದ. ಇದರಿಂದ ವೀರಶೈವ ಧರ್ಮ ಹೊಸ ಆಯಾಮವನ್ನೇ ಪಡೆಯಿತು." ಇಷ್ಟೆಲ್ಲ ಇದ್ದರೂ ಪ್ರಭುದೇವ ಯಾವೊಂದೂ ಸೀಮಿತ ಧರ್ಮದ ವಲಯಕ್ಕೆ ಸಿಲುಕಿರಲಿಲ್ಲವೆಂಬುದು ಗಮನಿಸಬೇಕಾದ ಅಂಶ. "ಆತನಲ್ಲಮ ಸಕಲಸಮಯ ಪ್ರೀತ" ಎಂಬ ಚಾಮರಸನ ಮಾತನ್ನು ಇಲ್ಲಿ ನೆನಪಿಸಿಕೊಳ್ಳಬೇಕು. ಆತನದು ಪೂರ್ಣ ದೃಷ್ಟಿ. ಸೂಕ್ಷ್ಮವಾಗಿ ಪರಿಶೀಲಿಸಿದಾಗ ಅವನ

ವಚನಗಳಲ್ಲಿ ಯಾವುದೇ ಸಂಪ್ರದಾಯದ ಪ್ರತಿಪಾದನೆಯಿಲ್ಲದಿರುವುದು ಅರಿವಿಗೆ ಬರುತ್ತದೆ. ಆದುದರಿಂದಲೇ ಇಂದಿನ ವಿಚಾರವಂತರಿಗೆ ಪ್ರಭುದೇವ ಹೆಚ್ಚು ಪ್ರಿಯನಾಗುತ್ತಾನೆ ಹಾಗೂ ಆತನ ವಿಚಾರಗಳು ಇಂದಿಗೂ ಪ್ರಸ್ತುತವೆನಿಸುತ್ತವೆ.

## ಪರಿಷ್ಕರಣ

ಅಲ್ಲಮಪ್ರಭುವಿನ ವಚನಗಳನ್ನು ಸಂಗ್ರಹಿಸಿ, ಸಂಪಾದಿಸುವ ಸಂದರ್ಭದಲ್ಲಿ ಎದುರಿಸಬೇಕಾಗಿ ಬಂದ ಸಮಸ್ಯೆಗಳ ಬಗ್ಗೆ ಹಾಗೂ ಅವುಗಳನ್ನು ಸಾಧ್ಯವಾದಮಟ್ಟಿಗೆ ಬಿಡಿಸಿಕೊಳ್ಳಲು ಪ್ರಯತ್ನಿಸಿದ ಬಗ್ಗೆ ಒಂದೆರಡು ಮಾತು:

ಬೇರೆ ಬೇರೆ ಆಕರಗಳಲ್ಲಿ ಅಲ್ಲಮಪ್ರಭುದೇವನ ಹೆಸರಿನಲ್ಲಿ ಬಂದಿರುವ ಕೆಲವು ಸುದೀರ್ಘ ವಚನಗಳನ್ನು ಓದಿದಾಗ, ಅವು ಅವನ ವಚನಗಳಲ್ಲವೆಂಬ ಅನಿಸಿಕೆ ಉಂಟಾಗುತ್ತದೆ. ಅಂಥ ವಚನಗಳನ್ನು ಪ್ರಸ್ತುತ ಸಂಪುಟದಲ್ಲಿ ಸಾಮಾನ್ಯವಾಗಿ ಸೇರಿಸಿಲ್ಲ. ಕೆಲವು ಆಕರಗಳಲ್ಲಿ ಎರಡು ವಚನಗಳು ಸೇರಿ ಒಂದು ವಚನ ಆಗಿರುವುದೂ ಇದೆ. 'ಶಿವಯೋಗ ಚಿಂತಾಮಣಿ'ಯಲ್ಲಿ "ಇಷ್ಟಲಿಂಗವೆ ಪ್ರಾಣಲಿಂಗವೆಂಬ ಮಿಟ್ಟಿಯ ಭಂಡರು" ಎಂದು ಆರಂಭವಾಗುವ ವಚನದಲ್ಲಿ (೯೬೪), "ಊರಕ್ಕಿ ಊರೆಣ್ಣೆ ಉಣ್ಣು ಮಾರಿಕಾತಾಯೇ" ಎಂಬ ಮತ್ತೊಂದು ವಚನ (೪೦೭) ಸೇರಿಕೊಂಡಿದೆ. ಇವೆರಡನ್ನು ಇಲ್ಲಿ ಬಿಡಿಸಿ ಬೇರೆ ಮಾಡಲಾಗಿದೆ. ಬೇರೆ ಬೇರೆ ಆಕರಗಳಲ್ಲಿ ಒಂದು ವಚನದ ಆರಂಭ ಒಂದೇ ಬಗೆಯಾಗಿದ್ದರೂ ಮುಂದಿನ ಚರಣಗಳಲ್ಲಿ ಅಲ್ಪ ಸ್ವಲ್ಪ ವ್ಯತ್ಯಾಸ ಕಂಡುಬರುತ್ತದೆ. ಇಂಥ ಸಂದರ್ಭದಲ್ಲಿ ಬೇರೆ ಆಧಾರಗಳ ಹಿನ್ನೆಲೆಯಲ್ಲಿ ಸರಿಯೆನಿಸಿದ ಒಂದನ್ನು ಇಟ್ಟುಕೊಂಡು ಮತ್ತೊಂದನ್ನು ಕೈಬಿಡಲಾಗಿದೆ. ಕೆಲವೊಮ್ಮೆ ಒಂದು ವಚನದ ಆರಂಭದ ಒಂದೆರಡು ಸಾಲುಗಳು ಮಿಕ್ಕ ಆಕರಗಳಲ್ಲಿ ಕಂಡುಬರುವದಿಲ್ಲ. ಉದಾ: ಕರ್ನಾಟಕ ವಿಶ್ವವಿದ್ಯಾಲಯದ ಪ್ರಕಟನೆಯಲ್ಲಿ ೧೦೨೦ನೆಯ ವಚನದ ಆರಂಭದಲ್ಲಿ ಬರುವ "ಭವಿಯೊಂದು ಕುಲ, ಭಕ್ತನೊಂದು ಕುಲ.........ಪಂಚಮಹಾಪಾತಕ, ಬಸವಾ" ಎಂಬ ಭಾಗ ಬೇರೆ ಯಾವುದೇ ಆಕರಗಳಲ್ಲಿ ಇಲ್ಲ. ಆದುದರಿಂದ ಇದನ್ನು ಕೈಬಿಟ್ಟು ಎಲ್ಲ ಪ್ರತಿಗಳಲ್ಲಿರುವ ಭಾಗವನ್ನು ಮಾತ್ರ ಇಟ್ಟುಕೊಳ್ಳಲಾಗಿದೆ.

ಅಂಕಿತಪಲ್ಲಟದ ಸಮಸ್ಯೆಯಂತೂ ತುಂಬಾ ಜಟಿಲ. ಹೋಲಿಕೆಯುಳ್ಳ ಅಂಕಿತಗಳು ('ಕೂಡಲಸಂಗಮದೇವಾ', 'ಕೂಡಲ ಚೆನ್ನಸಂಗಮದೇವಾ'ದಂತಹವು) ಪಲ್ಲಟಗೊಂಡಿದ್ದರೆ ಆ ಮಾತು ಬೇರೆ. ಆದರೆ ಪರಸ್ಪರ ಯಾವ ಹೋಲಿಕೆಯೂ ಇಲ್ಲದ ಅಂಕಿತಗಳು ಪಲ್ಲಟಗೊಂಡಿರುವುದು ಆಶ್ಚರ್ಯಕರ. 'ಶಿವಯೋಗ ಚಿಂತಾಮಣಿ'ಯಲ್ಲಿ ಬರುವ 'ಅನ್ನದಾನಿ ವಸ್ತ್ರದಾನಿ ಹಿರಣ್ಯದಾನಿಗಳ" (೩೮೯) ಮತ್ತು "ಶೀಲವಂತರೊಂದು ಲಕ್ಷ, ನೇಮಸ್ತರೊಂದು ಲಕ್ಷ" (೩೮೧) ಎಂಬ ಈ ಎರಡು ವಚನಗಳು 'ಗುಹೇಶ್ವರ' ಅಂಕಿತದಿಂದ ಕೂಡಿವೆ. ಇವೇ ವಚನಗಳು ಕರ್ನಾಟಕ ವಿಶ್ವವಿದ್ಯಾಲಯ ಪ್ರಕಟಿಸಿರುವ 'ಚೆನ್ನಬಸವಣ್ಣನವರ ವಚನಗಳು' ಗ್ರಂಥದಲ್ಲಿ ಕೂಡಲಚೆನ್ನಸಂಗಮದೇವ ಅಂಕಿತದಲ್ಲಿ ಕಂಡುಬರುತ್ತವೆ (೯೩, ೮೨೨). "ಜ್ಞಾನ ಷಟ್ಸ್ಥಲಸಾರ"ದಲ್ಲಿ 'ಸದ್ಭಕ್ತಂಗೆಯೂ ಜಂಗಮಕ್ಕೆಯೂ ಭಾಜನ ಬೇರೆಂಬ ಶಾಸ್ತ್ರಪಥಿಕರು" ಎಂಬ ವಚನ ಗುಹೇಶ್ವರ

ಅಂಕಿತದಲ್ಲಿದ್ದರೆ ಅದೇ ವಚನ ಕೂಡಲಸಂಗಮದೇವಾ ಅಂಕಿತದಲ್ಲಿಯೂ ಸಿಗುತ್ತದೆ. "ಅಯ್ಯಾ. ಕೊರಡು ಕೊನರಾಗಬಲ್ಲುದೆ" ಎಂಬ ಒಂದು ವಚನ 'ಚಿದೈಶ್ವರ್ಯ ಚಿದಾಭರಣ'ದಲ್ಲಿ (೩೭೭) ಗುಹೇಶ್ವರಲಿಂಗ ಅಂಕಿತದಲ್ಲಿದೆ. ಸೂಕ್ಷ್ಮವಾಗಿ ಪರಿಶೀಲಿಸಿದರೆ ಅದರಲ್ಲಿ ಎರಡು ವಚನಗಳಿರುವುದು ಹೊಳೆಯುತ್ತಿದ್ದು. ಎರಡನೆಯ ವಚನ "ಕೆರೆ ಒಡೆದ ಬಳಿಕ ತುಂಬು ತಡೆಯಬಲ್ಲದೆ" ಎಂಬಲ್ಲಿಂದ ಆರಂಭವಾಗುತ್ತದೆ. ಇನ್ನೂ ಆಶ್ಚರ್ಯವೆಂದರೆ ಇವೆರಡೂ ವಚನಗಳು ತೋಂಟದ ಸಿದ್ಧಲಿಂಗಯತಿಯ ವಚನಗಳಾಗಿವೆ. (೬೪೫. ೬೪೬). 'ಚಿದೈಶ್ವರ್ಯ ಚಿದಾಭರಣ'ದಲ್ಲಿ 'ಗುಹೇಶ್ವರ ಪ್ರಭುಲಿಂಗ' 'ಗುಹೇಶ್ವರ ಲಿಂಗಪ್ರಭು' 'ಗುಹೇಶ್ವರ ಪ್ರಭು' ಅಂಕಿತದಿಂದ ಕಂಡುಬರುವ ವಚನಗಳಲ್ಲಿ ಹೆಚ್ಚಿನವು ತೋಂಟದ ಸಿದ್ಧಲಿಂಗಯತಿಯ ಎಗದೋ. ಮೂರೋ ವಚನಗಳನ್ನು ಒಳಗೊಂಡಿರುವುದು ಗಮನಿಸಬೇಕಾದ ವಿಷಯ. ಅದೇ ರೀತಿ 'ಶಿವಯೋಗಚಿಂತಾಮಣಿ'ಯಲ್ಲಿ ಗುಹೇಶ್ವರ ಅಂಕಿತದಿಂದ ಸಮಾವೇಶಗೊಂಡಿರುವ ೩೯೭ ರಿಂದ ೪೦೪ ರ ವರೆಗಿನ ವಚನಗಳು ತೋಂಟದ ಸಿದ್ಧಲಿಂಗಯತಿಯ ವಚನಗಳಾಗಿರುವುದನ್ನು (೪೬೮. ೪೬೯. ೪೬೭. ೪೭೦. ೪೭೧. ೪೭೨. ೪೭೪. ೪೭೫) ಗಮನಿಸಬೇಕು. ಇಂಥ ಇನ್ನೂ ಕೆಲವು ಉದಾಹರಣೆಗಳು ಅಲ್ಲಲ್ಲಿ ಸಿಗುತ್ತವೆ.

ಇಂಥ ಸಂದರ್ಭಗಳಲ್ಲಿ ಒಂದು ವಚನ ಇಂಥವರದೇ ಎಂದು ನಿರ್ದಿಷ್ಟಪಡಿಸುವುದು ಎಷ್ಟು ಜಟಿಲವೆಂದರೆ ಬೇರೆ ಹೇಳಬೇಕಾಗಿಲ್ಲ. ಇಲ್ಲೆಲ್ಲ ಆಯಾ ವಚನಕಾರರ ವಚನಗಳ ಭಾಷೆ. ಶೈಲಿ. ರಚನಾವಿನ್ಯಾಸ. ಆಕರಗಳ ಕಾಲ ಹಾಗೂ ಅವುಗಳ ವಿಶ್ವಾಸಾರ್ಹತೆ – ಇತ್ಯಾದಿಗಳನ್ನು ಗಮನಿಸಿ ಈ ವಚನ ಪ್ರಭುದೇವರದಿರಬೇಕೆಂದು ಸದ್ಯಕ್ಕೆ ಭಾವಿಸಿ. ಪ್ರಸ್ತುತ ಸಂಪುಟದಲ್ಲಿ ಸೇರಿಸಲಾಗಿದೆ.

ಕರ್ನಾಟಕ ವಿಶ್ವವಿದ್ಯಾಲಯ ಪ್ರಕಟಿಸಿದ 'ಅಲ್ಲಮಪ್ರಭುದೇವರ ವಚನಗಳು' ಗ್ರಂಥದಲ್ಲಿ ೧೨೪೦ರಿಂದ ೧೨೪೫ರ ವರೆಗಿನ ವಚನಗಳು ಪ್ರಾಸಯುಕ್ತವಾಗಿದ್ದು. ಅವು ಹಾಡುಗಳ ನುಡಿಗಳಾಗಿರಬೇಕೆಂದೆನಿಸುತ್ತದೆ. ಆದುದರಿಂದ ಅವುಗಳನ್ನು ಇಲ್ಲಿ ಸೇರಿಸಿಲ್ಲ. "ಇಂತು ಘನಘಟ್ಟಿಸ್ವರೂಪ ಚೆನ್ನಬಸವೇಶ್ವರಸ್ವಾಮಿಗಳು" ಎಂದು ಆರಂಭವಾಗುವ ಗುಹೇಶ್ವರ ಅಂಕಿತದ ಒಂದು ವಚನ (೩೮೫) 'ಚಿದೈಶ್ವರ್ಯ ಚಿದಾಭರಣ'ದಲ್ಲಿ ಬರುತ್ತದೆ. ಅದನ್ನು ಓದಿದಾಗ ಅದು ವಚನವೆನಿಸದೆ ವಚನವೊಂದಕ್ಕೊ ಅಥವಾ ಘಟನೆಯೊಂದಕ್ಕೊ ಹಿನ್ನೆಲೆಯಾಗಿ ಬಂದಿರುವ ಒಂದು ವಿವರವೆನಿಸುತ್ತದೆ. ಆದುದರಿಂದ ಅದನ್ನು ಪ್ರಸ್ತುತ ಕೃತಿಯಲ್ಲಿ ಸೇರಿಸಿಲ್ಲ. ಈ ಬಗೆಯ ಸಮಸ್ಯೆಗಳು ಷಟ್‌ಸ್ಥಲದ ವಚನಗಳಲ್ಲಿ ಬರದಿರುವುದು ಗಮನಿಸಬೇಕಾದ ಅಂಶ.

ಪ್ರಸ್ತುತ ಸಂಪುಟದಲ್ಲಿ ಸಮಾವೇಶವಾಗಿರುವ ಪ್ರಭುದೇವರ ಷಟ್‌ಸ್ಥಲ ವಚನಗಳ ಸಂಪಾದನೆಗೆ ಕರ್ನಾಟಕ ವಿಶ್ವವಿದ್ಯಾಲಯದ ಕನ್ನಡ ಅಧ್ಯಯನಪೀಠದ ಹಸ್ತಪ್ರತಿ ಭಾಂಡಾರದ ೪೫ನೆಯ ಕ್ರಮಸಂಖ್ಯೆಯ ತಾಡೋಲೆಪ್ರತಿಯನ್ನು ಮೂಲವಾಗಿ ಇಟ್ಟುಕೊಂಡಿದ್ದು. ಉದ್ದಕ್ಕೂ ಅದನ್ನೇ ಅನುಸರಿಸಿಕೊಂಡು ಬರಲಾಗಿದೆ. ಕ್ವಚಿತ್ತಾಗಿ ಕ್ರಮ ಸಂಖ್ಯೆ ೪೩೬ ಮತ್ತು ೪೩ನೆಯ ತಾಡೋಲೆ ಪ್ರತಿಗಳ ಸಹಾಯ ಪಡೆದಿದ್ದೇವೆ.

೪೫ನೆಯ ಕ್ರಮಸಂಖ್ಯೆಯ ಪ್ರತಿ ಶುದ್ಧವಾಗಿದ್ದು ಶಕಟರೇಫನ್ನು ಅಲ್ಲಿ ಸರಿಯಾಗಿ ಬಳಸಲಾಗಿದೆ. ಇದರ ಇನ್ನೊಂದು ವಿಶೇಷವೆಂದರೆ. ತರುವಾಯದ ಯಾರೋ ಅಭ್ಯಾಸಿಗಳು ಬೇರೆ ಪ್ರತಿಯನ್ನು ನೋಡಿ ತಮಗೆ ಸರಿಯೆನಿಸಿದ ಪಾಠಗಳನ್ನು. ಇಲ್ಲವೆ ಹೆಚ್ಚಿನ ಭಾಗಗಳನ್ನು. ಗರಿಯ ಮಗ್ಗುಲಲ್ಲೋ ಸಾಲಿನ ಮೇಲೋ ಬರೆದಿದ್ದಾರೆ. ಆದುದರಿಂದ ಇದಕ್ಕೆ ಎರಡು ಪ್ರತಿಯ ಬೆಲೆ ಇದೆ.

ಹೆಚ್ಚಿನ ವಚನಗಳ ಸಂಪಾದನೆಗೆ ಕರ್ನಾಟಕ ವಿಶ್ವವಿದ್ಯಾಲಯ ಪ್ರಕಟಿಸಿದ "ಅಲ್ಲಮಪ್ರಭುದೇವರ ವಚನಗಳು" ಕೃತಿಯನ್ನೇ ಮೂಲವಾಗಿಟ್ಟುಕೊಂಡು. ಅವಶ್ಯವೆನಿಸಿದಲ್ಲಿ ಬೇರೆ ಮುದ್ರಿತ ಪ್ರತಿಗಳ. ಮುಖ್ಯವಾಗಿ ಡಾ. ಎಲ್. ಬಸವರಾಜು ಮತ್ತು ಶ್ರೀ ಇಮ್ಮಡಿ ಶಿವಬಸವಸ್ವಾಮಿಗಳು ಸಂಪಾದಿಸಿರುವ ಅಲ್ಲಮಪ್ರಭುದೇವರ ವಚನಗಳ ಸಹಾಯ ಪಡೆಯಲಾಗಿದೆ. ಈ ಭಾಗದ ವಚನಗಳಲ್ಲಿ ಹೆಚ್ಚಿನವು ಶೂನ್ಯಸಂಪಾದನೆಗಳಲ್ಲಿಯವು. ಸಂದಿಗ್ಧ ಪರಿಹಾರಕ್ಕಾಗಿ ಕನ್ನಡ ಅಧ್ಯಯನ ಪೀಠದ ವಚನಭಾಂಡಾರದಲ್ಲಿಯ ಶೂನ್ಯಸಂಪಾದನೆಯ ಹಸ್ತಪ್ರತಿಗಳ ಸಹಾಯ ಪಡೆಯಲಾಗಿದೆ.

ನಾವು ಬಳಸಿದ ಹಸ್ತಪ್ರತಿಗಳಲ್ಲಿ. ಕಾಬಡೆ – ಕಾಂಬಡೆ. ಮಾಡೂದು – ಮಾಡುವುದು. ಉಡುವುದೆ – ಉಡೂದೆ. ಇರ್ದವು – ಇದ್ದವು. ಬರ್ಪುದು – ಬಪ್ಪುದು. ಅಸ್ನಕ್ಕ – ಅಸ್ನಕ್ಕರ ಹೀಗೆ ಎರಡೂ ಬಗೆಯ ಪ್ರಯೋಗಗಳು ಇವೆ. ಅವನ್ನು ಹಾಗೆಯೇ ಉಳಿಸಿಕೊಳ್ಳಲಾಗಿದೆ. ಮೇಲೆ ಹೇಳಿದಂತೆ ೪೫ನೆಯ ಕ್ರಮಸಂಖ್ಯೆಯ ತಾಡೋಲೆ ಪ್ರತಿಯ ಪಾಠಗಳನ್ನೇ ಷಟ್‌ಸ್ಥಲವಚನಗಳಲ್ಲಿ ಉದ್ದಕ್ಕೂ ಇಟ್ಟುಕೊಂಡಿದ್ದರೂ. ಕೆಲವೆಡೆ ನನಗೆ ಸರಿಯೆನಿಸಿದ್ದನ್ನು ಚೌಕ ಕಂಸದಲ್ಲಿ ಕೊಡಲಾಗಿದೆ. ಹಾಗೆಯೇ "ಈ ಪಾಠವಿದ್ದರೆ ಸರಿಯೆ ?" ಎಂಬ ಸಂಶಯ ಬಂದಲ್ಲಿ. ಅದನ್ನು ಪ್ರಶ್ನಾರ್ಥಕ ಚಿಹ್ನೆಯೊಂದಿಗೆ ದುಂಡು ಕಂಸದಲ್ಲಿ ಕೊಡಲಾಗಿದೆ.

ಕೈತಪ್ಪಿನಿಂದಲೊ. ಕಣ್ತಪ್ಪಿನಿಂದಲೊ ಹಸ್ತಪ್ರತಿಗಳಲ್ಲಿ ಒಂದು ಅಕ್ಷರಕ್ಕೆ ಬದಲಾಗಿ ಮತ್ತೊಂದು ಅಕ್ಷರ ಬಂದು ಸೇರಿರುವುದುಂಟು. ಹಾಗೆಯೇ ಒಂದು ಶಬ್ದದ ಒಂದು ಅಕ್ಷರ ಮತ್ತೊಂದು ಶಬ್ದದೊಡನೆ ಸೇರಿ ಅರ್ಥವ್ಯತ್ಯಾಸವಾಗಿದ್ದುದೂ ಇದೆ. ಅವೆಲ್ಲವನ್ನೂ ನನಗೆ ಹೊಳೆದ ಮಟ್ಟಿಗೆ ಪರಿಷ್ಕರಿಸಲು ಪ್ರಯತ್ನಿಸಿರುವೆ. "ಆಸೆಯ ಚೋಹವ ತೊಟ್ಟು ನಾಯಾಗಿ ಬೊಗಳುವ ಮಾನವರನೇನೆಂಬೆ" (೪೮೪) ಎಂಬುದನ್ನು. ಅಲ್ಲಿಯ ಸಂದರ್ಭವನ್ನು ಅನುಲಕ್ಷಿಸಿ "ಆನೆಯ ಚೋಹವ ತೊಟ್ಟು" ಎಂದು ತಿದ್ದಿಕೊಳ್ಳಲಾಗಿದೆ. ಮತ್ತೊಂದು ವಚನದಲ್ಲಿ "ಮಾತಿನಂತುಟಲ್ಲ ಶಿವಾಚಾರದ ಸರಿದೊಡಕು ಕಾಣಿರಣ್ಣಾ" (೫೦೦) ಎಂದು ಬರುತ್ತದೆ. ಇಲ್ಲಿ 'ಸರಿದೊಡಕು' ಎಂಬ ಮಾತು ಅಷ್ಟಾಗಿ ಹೊಂದಿಕೊಳ್ಳುವುದಿಲ್ಲ. ಆದುದರಿಂದ " ಮಾತಿನಂತುಟಲ್ಲ ಶಿವಾಚಾರ. ದಸರಿದೊಡಕು ಕಾಣಿರಣ್ಣಾ" ಎಂದು ಪರಿಷ್ಕರಿಸಲಾಗಿದೆ. 'ದಸರಿದೊಡಕು' ಎಂದರೆ ರೇಶಿಮೆಯ ತೊಡಕು. ಗಂಟು ಎಂದರ್ಥ. ರೇಶಿಮೆಯ ತೊಡಕನ್ನು ಬಿಡಿಸುವುದು ಎಷ್ಟು ಕಷ್ಟವೋ. ಶಿವಾಚಾರವನ್ನು ಆಚರಿಸುವುದೂ ಅಷ್ಟೇ

ಕಷ್ಟವೆಂಬ ಅರ್ಥ ಇದರಿಂದ ಹೊರಡುತ್ತದೆ. ಇದೇ ಹೆಚ್ಚು ಸಮಂಜಸವೆಂಬ ಭಾವನೆ ನನ್ನದು. ಇಂಥವು ಇನ್ನೂ ಕೆಲವಿದೆ. ಒಂದೆರಡನ್ನು ಮಾತ್ರ ಉದಾಹರಣೆಗೆ ಇಲ್ಲಿ ಕೊಟ್ಟಿದೆ.

ಕರ್ನಾಟಕ ವಿಶ್ವವಿದ್ಯಾಲಯದ 'ಅಲ್ಲಮಪ್ರಭುದೇವರ ವಚನಗಳು' ಪ್ರಕಟವಾದ ಮೇಲೆ ಮತ್ತೆ ಹಲವಾರು ವಚನಸಂಕಲನಗಳು ಹೊರಬಂದಿವೆ. ಹೀಗಿದ್ದೂ ಇನ್ನೂ ಕೆಲವು ಹಸ್ತಪ್ರತಿಯಲ್ಲಿಯೇ ಉಳಿದುಕೊಂಡಿದ್ದವು. ನಮಗೆ ದೊರೆತ ಇವೆಲ್ಲವುಗಳ ಸಹಾಯವನ್ನು ಪ್ರಸ್ತುತ ಸಂಪುಟವನ್ನು ಸಿದ್ಧಪಡಿಸುವಲ್ಲಿ ಪಡೆಯಲಾಗಿದೆ. ಅವುಗಳ ಒಂದು ಪಟ್ಟಿಯನ್ನು ಅನುಬಂಧದಲ್ಲಿ ಕೊಡಲಾಗಿದೆ.

ಪ್ರಸ್ತುತ ವಚನಸಂಪುಟವನ್ನು ಸಿದ್ಧಪಡಿಸುವ ಕಾರ್ಯವನ್ನು ನನಗೆ ವಹಿಸಿಕೊಟ್ಟ, 'ಕನ್ನಡ ಮತ್ತು ಸಂಸ್ಕೃತಿ ನಿರ್ದೇಶನಾಲಯ'ದ ಅಧಿಕಾರಿಗಳಿಗೆ, ಆಕರಗಳನ್ನು ಒದಗಿಸುವಲ್ಲಿ ಹೆಚ್ಚಿನ ಸಹಾಯ ನೀಡಿದ ಡಾ. ಎಂ. ಎಂ. ಕಲಬುರ್ಗಿ ಅವರಿಗೆ, ಸಲಹಾಸಮಿತಿಯ ಸದಸ್ಯರಾದ ಡಾ. ಎಂ. ಚಿದಾನಂದಮೂರ್ತಿ, ಸಿ. ಪಿ. ಕೃಷ್ಣಕುಮಾರ, ಎಸ್. ವಿದ್ಯಾಶಂಕರ, ಎಸ್. ಶಿವಣ್ಣ ಅವರಿಗೆ ನನ್ನ ಹಾರ್ದಿಕ ಕೃತಜ್ಞತೆಗಳು.

## ಪರಿಷ್ಕೃತ ಆವೃತ್ತಿ

ಮೊದಲ ಮುದ್ರಣದ ಪ್ರಸ್ತಾವನೆಯಲ್ಲಿ ವಚನಗಳ ಸಂಪಾದನೆಗೆ ಅನುಸರಿಸಿದ ವಿಧಾನಗಳನ್ನು ಕುರಿತು ಕೆಲವು ಮಾತುಗಳನ್ನು ಹೇಳಲಾಗಿದೆ. ಎಲ್ಲ ಹದಿನಾಲ್ಕು ವಚನ ಸಂಪುಟಗಳು ನಮ್ಮ ಕೈಗೆ ಬಂದಾಗ, ಅವು ಒಳಗೊಂಡಿರುವ ವಚನಗಳ ಆಕಾರಾದಿಗಳ ಸಹಾಯದಿಂದ ಮತ್ತು ಬಹುತೇಕ ಎಲ್ಲ ಸಂಪುಟಗಳನ್ನು ಓದುವ ಮೂಲಕ, ಯಾರ ವಚನ ಯಾರಲ್ಲಿ ಸೇರಿದೆಯೆಂಬುದನ್ನು ಗುರುತಿಸಲು, ಜೊತೆಗೆ ಎಷ್ಟೇ ಎಚ್ಚರಿಕೆವಹಿಸಿದರೂ, ಮೊದಲ ಮುದ್ರಣದಲ್ಲಿ ಉಳಿದು ಹೋಗಿದ್ದ ಪುನರುಕ್ತ ವಚನಗಳನ್ನು ಕಂಡು ಹಿಡಿಯಲು ಸಾಧ್ಯವಾಯಿತು. ಈ ನಿಟ್ಟಿನಲ್ಲಿ ತುಮಕೂರಿನ ಶ್ರೀ ಎಂ. ಚಂದ್ರಪ್ಪ ಅವರಿಂದ ದೊರೆತ ನೆರವನ್ನು ಕೃತಜ್ಞಾತಪೂರ್ವಕ ನೆನೆಯುತ್ತೇನೆ. ಕ್ರಿ.ಶ. ೧೯೯೩ರಲ್ಲಿ ಈ ಸಂಪುಟದ ಮೊದಲ ಮುದ್ರಣ ಹೊರಬಂದ ನಂತರ, ಅಲ್ಲಮಪ್ರಭುದೇವರ ಕೆಲವು ಹೊಸ ವಚನಗಳನ್ನು ವಿದ್ವಾಂಸರು ಗುರುತಿಸಿದ್ದಾರೆ. ನನ್ನ ಗಮನಕ್ಕೂ ಕೆಲವು ಹೊಸ ವಚನಗಳು ಬಂದಿವೆ.

ಈ ಹಿನ್ನಲೆಯಲ್ಲಿ, ಪ್ರಸ್ತುತ ಎರಡನೆಯ ಮುದ್ರಣದ ಪರಿಷ್ಕರಣದ ಬಗ್ಗೆ ಒಂದೆರಡು ಮಾತು :

೧. ಒಂದು ವಚನ 'ಷಟ್‌ಸ್ಥಲ ವಚನಗಳು' ಭಾಗದಲ್ಲಿದ್ದು, ಅದು 'ಹೆಚ್ಚಿನ ವಚನಗಳು' ಭಾಗದಲ್ಲೂ ಬಂದಿದೆ. 'ಷಟ್‌ಸ್ಥಲ ವಚನಗಳು' ಭಾಗದಲ್ಲಿದ್ದುದನ್ನು ಇಟ್ಟುಕೊಂಡು 'ಹೆಚ್ಚಿನ ವಚನಗಳು' ಭಾಗದಲ್ಲಿದ್ದುದನ್ನು ತೆಗೆದುಹಾಕಿದೆ.

೨. 'ಹೆಚ್ಚಿನ ವಚನಗಳು' ಭಾಗದಲ್ಲಿ ಯಾವುದಾದರೂ ವಚನ ಪುನರಾವರ್ತನೆಗೊಂಡಿದ್ದರೆ ಯೋಗ್ಯವೆನಿಸಿದ್ದನ್ನು ಇಟ್ಟುಕೊಂಡು ಇನ್ನೊಂದನ್ನು ಬಿಟ್ಟುಬಿಡಲಾಗಿದೆ.

೩. ಒಂದು ವಚನ ಇಬ್ಬರಲ್ಲಿ ಬಂದಿದ್ದರೆ, ಯಾರಲ್ಲಿ ಅದು 'ಷಟ್‌ಸ್ಥಲ' ಭಾಗದಲ್ಲಿದೆಯೊ, ಅವರಲ್ಲಿ ಅದನ್ನು ಇಟ್ಟುಕೊಂಡು, ಇನ್ನೊಬ್ಬರಲ್ಲಿ 'ಹೆಚ್ಚಿನ ವಚನಗಳು' ಭಾಗದಲ್ಲಿ ಬಂದಿರುವುದನ್ನು ತೆಗೆದುಹಾಕಲಾಗಿದೆ.

೪. ಅಲ್ಲಮಪ್ರಭುವಿನ 'ಹೆಚ್ಚಿನ ವಚನಗಳು' ಭಾಗದಲ್ಲಿ ಸೇರಿಕೊಂಡಿದ್ದ "ಕೆರೆಯೊಡೆದ ಬಳಿಕ ತೂಬು ತಡೆಯಬಲ್ಲುದೆ....?" "ಅಜನೆಂಬ ಅಶ್ವದ ಮೇಲೆ ಹರಿಯೆಂಬ ಹಕ್ಕರಿಕೆಯ ಹಾಕಿ" ಮತ್ತು "ದುಸ್ವಪ್ನವ ಕಾಣದಿರಿ" ಎಂದು ಆರಂಭವಾಗುವ ವಚನಗಳು ಅನುಕ್ರಮವಾಗಿ, ತೋಂಟದ ಸಿದ್ಧಲಿಂಗ, 'ಜಂಗಮಲಿಂಗ' ಅಂಕಿತದ ವಚನಕಾರ, ಹಾಗೂ ಎಚ್ಚರಿಕೆ ಕಾಯಕದ ಮುಕ್ತಿನಾಥ ಇವರ ವಚನಗಳಾಗಿವೆ. ಆದುದರಿಂದ ಅಲ್ಲಮನಿಂದ ಅವುಗಳನ್ನು ತೆಗೆದು ಹಾಕಲಾಗಿದೆ.

೫. ಇಬ್ಬರು ವಚನಕಾರರ ವಚನಗಳ ಆರಂಭ ಒಂದೇ ಆಗಿದ್ದು, ಅವುಗಳಲ್ಲಿ ಸಾಮ್ಯವಿದ್ದರೂ ಒಬ್ಬನ ವಚನದಲ್ಲಿ ಹೆಚ್ಚಿನ ಅಂಶಗಳಿದ್ದರೆ, ಇಲ್ಲವೆ ಒಂದಿಷ್ಟು ವ್ಯತ್ಯಾಸವಿದ್ದರೆ ಇಬ್ಬರಲ್ಲೂ ಅವನ್ನು ಉಳಿಸಿಕೊಳ್ಳಲಾಗಿದೆ.

೬. ಒಂದು ವಚನದ ಆದಿಯಲ್ಲೋ ಮಧ್ಯದಲ್ಲೋ, ಅಥವಾ ಅಂತ್ಯದಲ್ಲೋ ಅದರ ಕರ್ತೃವಿನ ಇಲ್ಲವೆ ಇನ್ನೊಬ್ಬನ ಇಡೀ ವಚನ ಅಥವಾ ವಚನದ ತುಂಡು ಸೇರಿಕೊಂಡಿದ್ದರೆ, ಅವನ್ನು ಗುರುತಿಸಿ, ಬೇರ್ಪಡಿಸಲಾಗಿದೆ. ಇಷ್ಟೆಲ್ಲ ಪರಿಶ್ರಮಿಸಿದ್ದರೂ ವಚನಗಳ ಪುನರಾವರ್ತನ, ಒಬ್ಬರ ವಚನ ಇನ್ನೊಬ್ಬರ ವಚನಗಳಲ್ಲಿ ಅಂಕಿತ ಪಲ್ಲಟದ ಕಾರಣವಾಗಿ ಸೇರ್ಪಡೆ ಇತ್ಯಾದಿಗಳು ಇನ್ನೂ ಉಳಿದಿರುವ ಸಾಧ್ಯತೆ ಇದೆ. ಓದುಗರಿಗೆ ಅಂಥವು ಕಂಡುಬಂದಲ್ಲಿ ಸರಿಪಡಿಸಿಕೊಂಡು ಓದುವಿರಾಗಿ ಆಶಿಸಿದ್ದೇನೆ.

ಇನ್ನೊಂದು ಮಾತನ್ನು ಇಲ್ಲಿ ಹೇಳಬೇಕು, ಮೊದಲ ಮುದ್ರಣದಲ್ಲಿ ಸೇರ್ಪಡೆ ಆಗದ ಕೆಲವು ವಚನಗಳನ್ನು ವಿದ್ವಾಂಸರು ಗುರುತಿಸಿದ್ದಾರೆ. ನನಗೂ ಕೆಲವು ಸಿಕ್ಕಿವೆ. ಮೈಸೂರಿನ ಜೆ. ಎಸ್. ಎಸ್. ಮಹಾವಿದ್ಯಾಪೀಠ ಪ್ರಕಟಿಸುತ್ತಿರುವ ದ್ವೈಮಾಸಿಕ ಪತ್ರಿಕೆ "ಪ್ರಸಾದ"ದಲ್ಲಿ (ಸಂಪುಟ ೧೧ - ಸಂಚಿಕೆ ೬) 'ಕೆಲವು ಹೊಸ ವಚನಗಳು' ಶೀರ್ಷಿಕೆಯಡಿ ಇತರ ವಚನಕಾರರ ವಚನಗಳ ಜೊತೆ ಅಲ್ಲಮಪ್ರಭುವಿನ ಆರು ವಚನಗಳನ್ನು ಕೊಡಲಾಗಿದೆ. ಅವುಗಳಲ್ಲಿ ಐದು ವಚನಗಳು ಮೊದಲ ಮುದ್ರಣದಲ್ಲಿ ಅಲ್ಪಸ್ವಲ್ಪ ವ್ಯತ್ಯಾಸದೊಂದಿಗೆ ಬಂದಿವೆ. ಅಲ್ಲಿಯ "ತನುವಳಿಯಿತ್ತು ಮನವಳಿಯಿತ್ತು" ಎಂದು ಆರಂಭವಾಗುವ ವಚನ, ಮಡಿವಾಳ ಮಾಚಿದೇವನದಾಗಿದೆ. (ಸಂಪುಟ ೮ - ವಚನ ೧೮೩) ಆದುದರಿಂದ ಅದನ್ನು ಸೇರಿಸಿಲ್ಲ.

ಶ್ರೀ ಎಸ್. ಶಿವಣ್ಣ ಅವರು. ಮೊದಲ ಮುದ್ರಣದಲ್ಲಿ ಸೇರಿಲ್ಲವೆಂದು ಅಲ್ಲಮ ಪ್ರಭುವಿನ ಹತ್ತು ವಚನಗಳನ್ನು ಬೇರೆ ಬೇರೆ ಆಕರಗಳಿಂದ ಆಯ್ದು ನನಗೆ ಕೊಟ್ಟು ಉಪಕರಿಸಿದ್ದಾರೆ. ಅವರು ಕೊಟ್ಟ ಆ ಹತ್ತು ವಚನಗಳಲ್ಲಿ ನಾಲ್ಕು ವಚನಗಳು "ಗಣಭಾಷಿತರತ್ನಮಾಲೆ"ಯಲ್ಲಿಯವು. ಅವುಗಳಲ್ಲಿ "ಎನ್ನ ನೇತ್ರದಾಹಾರವನು". "ಜಿನನು ದೇವನೆಂಬರು" ಎಂಬ ಎರಡು ವಚನಗಳು ನನ್ನ ಗಮನಕ್ಕೆ ಮೊದಲೇ ಬಂದಿದ್ದವು. ಆದರೆ ಕೆಲವು ಕಾರಣಗಳಿಂದಾಗಿ ಮೊದಲ ಮುದ್ರಣದಲ್ಲಿ ಅವನ್ನು ಸೇರಿಸಿರಲಿಲ್ಲ. ಈಗಲೂ ಹಾಗೇ ಮಾಡಲಾಗಿದೆ. ಅವರು ಸೂಚಿಸಿರುವ "ಲೋಕ ಒಂದನೆಂದರೆ ತಾನೊಂದನೆನಬೇಡ" ಎಂಬ ಗಣಭಾಷಿತರತ್ನಮಾಲೆಯ ವಚನ ಮೊದಲಮುದ್ರಣದಲ್ಲಿ ಬಂದಿದೆ (ವಚನ ೩೫೩). ಆದರೆ ಅದರಲ್ಲಿ ಸಂಸ್ಕೃತ ಶ್ಲೋಕವಿಲ್ಲ. ಶ್ರೀ ಶಿವಣ್ಣ ಅವರು ಗುರುತಿಸಿರುವ. "ಶ್ರೀಗುರುಸ್ವಾಮಿ ಪೂರ್ವಾಶ್ರಯಮಂ ಕಳೆದು" ಎಂಬ ಗ. ಭಾ. ರತ್ನಮಾಲೆಯಲ್ಲಿಯ ವಚನವನ್ನು ಪ್ರಸ್ತುತ ಮುದ್ರಣದ 'ಹೆಚ್ಚಿನ ವಚನಗಳು' ಭಾಗದಲ್ಲಿ ಸೇರಿಸಲಾಗಿದೆ. ಅವರು ಕಳಿಸಿದ ಉಳಿದ ಆರು ವಚನಗಳನ್ನು ಇಲ್ಲಿ ಸಮಾವೇಶಗೊಳಿಸಿದೆ. ಅವೆಲ್ಲ ಪ್ರಭುವಿನ ವಚನಗಳೆಂದು ಸದ್ಯಕ್ಕೆ ಗ್ರಹಿಸಲಾಗಿದೆ.

'ಸದ್ಧರ್ಮದೀಪಿಕೆ' ಪತ್ರಿಕೆಯ ಸಂಪಾದಕರಾಗಿದ್ದ ಲಿಂ. ಚೆನ್ನಮಲ್ಲಿಕಾರ್ಜುನ (ಚನ್ನಮಲ್ಲಪ್ಪ) ಅವರ. ಪಾಲ್ಕುರಿಕೆ ಸೋಮನಾರಾಧ್ಯರ 'ಜ್ಯೋತಿರ್ಮಯ ಶಾಂಭವಜ್ಞಾನ ದೀಕ್ಷಾಬೋಧೆ' ಗ್ರಂಥದಲ್ಲಿ 'ಗುಹೇಶ್ವರ' ಅಂಕಿತದ ವಚನಗಳಿರುವುದರತ್ತ ಶ್ರೀ ಎಂ. ಚಂದ್ರಪ್ಪ ನನ್ನ ಗಮನ ಸೆಳೆದಿದ್ದಾರೆ. ಚನ್ನಮಲ್ಲಪ್ಪನವರು ಸಂಪಾದಿಸಿದ ಆ ಕೃತಿಯ ಒಂದು ಝರಾಕ್ಸ ಪ್ರತಿಯನ್ನು ಅವರು ನನಗೆ ಕಳಿಸಿಕೊಟ್ಟು ಉಪಕರಿಸಿದ್ದಾರೆ. ಅದರಲ್ಲಿಯ ಮೂರು ವಚನಗಳು ಮೊದಲ ಮುದ್ರಣದಲ್ಲಿ ಬಂದಿವೆ. (ವಚನ ಸಂ. ೨೯. ೩೩ ಮತ್ತು ೩೭) ಉಳಿದ ವಚನಗಳ ಭಾಷೆ. ಶೈಲಿ. ವಿಷಯ. ವಿವರಣಾವಿಧಾನ ಇತ್ಯಾದಿಗಳನ್ನು ಪರಿಶೀಲಿಸಿದಾಗ. ಅವೆಲ್ಲ ಅಲ್ಲಮನವೆ? ಎಂಬ ಸಂಶಯ ಉಂಟಾಗುತ್ತದೆ. ಆದರೂ ವೀರಶೈವ ತತ್ವಕ್ಕೆ ಸಂಬಂಧಿಸಿದಂತೆ ಮಹತ್ವಪೂರ್ಣ ವಿವರಗಳು ಅಲ್ಲಿರುವುದರಿಂದ ಅವನ್ನು 'ಪರಿಶಿಷ್ಟ'ದಲ್ಲಿ ಕೊಡಲಾಗಿದೆ.

ಪರಿಷ್ಕರಣ ಕಾರ್ಯವನ್ನು ನನಗೆ ಒಪ್ಪಿಸಿದ ಕರ್ನಾಟಕ ಸರಕಾರದ 'ಕನ್ನಡ ಮತ್ತು ಸಂಸ್ಕೃತಿ' ನಿರ್ದೇಶನಾಲಯದ ನಿರ್ದೇಶಕರಿಗೆ. ಅಲ್ಲಿಯ ಉಳಿದ ಅಧಿಕಾರಿ ವರ್ಗಕ್ಕೆ. ವಚನ ಸಂಪುಟಗಳ ಪ್ರಧಾನ ಸಂಪಾದಕರಿಗೆ. ಸಂಪಾದಕ ಮಂಡಳಿಯ ಉಳಿದ ಸದಸ್ಯರಿಗೆ ನನ್ನ ಅಭಿವಂದನೆಗಳು.

ಧಾರವಾಡ

**ಬಿ. ವಿ. ಮಲ್ಲಾಪುರ**

■ ■



# ಪರಿವಿಡಿ

## ಪೀಠಿಕಾ ಗದ್ಯ

ಸ್ವಸ್ತಿ, ಸಮಸ್ತಭುವನಜನದ ತಿಮಿರಹರಣಕಾರಣಸ್ವರೂಪರುಂ, ಭಕ್ತಿದೇಹಿಕದೇವರುಂ, ಭಕ್ತವತ್ಸಲರುಂ ಸರ್ವಾಂಗಪ್ರಾಣಲಿಂಗಮೂರ್ತಿವಿಲಾಸರುಂ, ಪುಲಿಗೆರೆಯ ಪುರವರಾಧೀಶ್ವರರುಂ ಅಪೂರ್ವ ಸ್ವಯಂಭೂ ಪ್ರಸನ್ನ ಚೆನ್ನದಕ್ಷಿಣ ಶ್ರೀ ಸೋಮನಾಥದೇವರ ದಿವ್ಯ ಶ್ರೀಪಾದಪದ್ಮಾರಾಧಕರುಂ ತ್ರಿಕಾಂಡನಿಷ್ಠರುಂ ಋಗ್ಯಜುಸ್ಸಾಮಾಥರ್ವಣಾಂತರ್ಗತ ಪ್ರತಿಪಾದ್ಯ ಪ್ರಮುಖರುಂ, ಶ್ರುತಿ ಸ್ಮೃತಿ ಪುರಾಣಾಗಮೇತಿಹಾಸಾದಿ ನಾನಾಶಾಸ್ತ್ರಕೋವಿದರುಂ ಪರಮ ವೀರಶೈವಾಗಮಾಚಾರ್ಯರುಂ, ಸಕಲಪ್ರಸಾದ ಪಂಚಾಕ್ಷರೀಮಂತ್ರಸಿದ್ಧರುಂ, ನಿತ್ಯಪರಿಪೂರ್ಣ ಸಚ್ಚಿದಾನಂದ ನಿರಂಜನ ಪರಂಜ್ಯೋತಿ ಸ್ವರೂಪರುಮಪ್ಪ ಪರಮಗುರುಮೂರ್ತಿ ಜಗದಾರಾಧ್ಯರುಮಪ್ಪ, ಮಹಾಲಿಂಗದೇವರ ಅನಾದಿಸಂಸಿದ್ಧ ಗುರುಕುಲದ ಅನ್ವಯವೆಂತೆಂದಡೆ :

ಪ್ರಥಮದಲ್ಲಿ ನಿತ್ಯನಿರಂಜನ ನಿರ್ಮಲನಪ್ಪ ಪರಶಿವನು: ದ್ವಿತೀಯದಲ್ಲಿ ವಾಙ್ಮನಾತೀತನಪ್ಪ ನಂದಿಕೇಶ್ವರನು, ತೃತೀಯದಲ್ಲಿ ಪರಮ ಋಷೀಶ್ವರನಪ್ಪ ದೂರ್ವಾಸದೇವರು, ಚತುರ್ಥದಲ್ಲಿ ದ್ವಿತೀಯಶಂಭು ತ್ರಿಣೇತ್ರದೇವರು. ಪಂಚಮದಲ್ಲಿ ಉರಿಲಿಂಗಪೆದ್ದಣ್ಣಗಳು, ಷಷ್ಠಮದಲ್ಲಿ ಸರ್ವೇಶ್ವರದೇವರು, ಸಪ್ತಮದಲ್ಲಿ ವಿಶ್ವೇಶ್ವರಪೆದ್ದಣ್ಣಗಳು, ಅಷ್ಟಮದಲ್ಲಿ ಸಂಹಿತೆಯ ಕಾಳಿದಾಸ ಭಟ್ಟರು, ನವಮದಲ್ಲಿ ಸದಾಶಿವದೇವರು, ದಶಮದಲ್ಲಿ ಪ್ರಣಮಿದೇವರು, ಏಕಾದಶದಲ್ಲಿ ಈಶಾನ್ಯದೇವರು, ದ್ವಾದಶದಲ್ಲಿ ಮೌನಿದೇವರು, ತ್ರಯೋದಶದಲ್ಲಿ ಚೆನ್ನಸೋಮಯ್ಯದೇವರು, ಚತುರ್ದಶದಲ್ಲಿ ಬಾಗೆಯ ಬಂಕನಾಥದೇವರು, ಪಂಚದಶದಲ್ಲಿ ಶಂಕರದೇವರು, ಷೋಡಶದಲ್ಲಿ ಗಂಗಾಧರ ದೇವರು, ಸಪ್ತದಶದಲ್ಲಿ ಬಂಕನಾಥದೇವರು, ಅಷ್ಟಾದಶದಲ್ಲಿ ಪುರಾಣದ ಮಾಯಿದೇವ ಪಂಡಿತರು, ನವದಶದಲ್ಲಿ ಶ್ರೀ ಬಂಕಯ್ಯದೇವರು, ವಿಂಶತಿಯಲ್ಲಿ ಮಹಾಲಿಂಗದೇವರು, ಏಕವಿಂಶತಿಯಲ್ಲಿ ಕುಮಾರ ಬಂಕನಾಥದೇವರು– (ಆ ಕುಮಾರ ಬಂಕನಾಥದೇವರ) ದಿವ್ಯಜ್ಞಾನಾನಂದಕರಕಮಲದಲ್ಲಿ ಉದಯವಾದ ನಿಜ ತತ್‌ಶಿಷ್ಯ ಭಕ್ತಿಭಂಡಾರಿ ಜಕ್ಕಣ್ಣನು ಆ ಶ್ರೀಗುರುರಾಯಂಗೆ ಬಿನ್ನಪಂ ಗೆಯಿದು "ಪರಮ ಗುರುವೆ ನಿಮ್ಮಡಿಗಳು ಎನ್ನ ಪೂರ್ವಜನ್ಮ ನಿವೃತ್ತಿಯ ಮಾಡಿ ಪುನರ್ಜಾತನೆನಿಸಿ ಅಂಗದಲ್ಲಿ ಲಿಂಗಪ್ರತಿಷ್ಠೆಯಂ ಮಾಡಿ ಪ್ರಣವಪಂಚಾಕ್ಷರಿಯ ಪ್ರಾಣಸ್ಥಲದಲ್ಲಿ ಸ್ಥಾಪಿಸಿ ಎನ್ನ ಕೃತಾರ್ಥನ ಮಾಡಿದಿರಿ. ದೇವಾ ಇನ್ನು ಎನ್ನ ಷಡಂಗವು ಲಿಂಗದಲ್ಲಿ ಲೀಯವಹ ಭೇದವ ನಿರೂಪವ ಕೊಟ್ಟು ಪಾಲಿಸೂದೆಂ"ದೊಡೆ.

ಆ ಶ್ರೀಗುರುಸ್ವಾಮಿ, ತಮ್ಮ ಪರಮಜ್ಞಾನಾನುಭಾವ ಪ್ರಸನ್ನ ಪ್ರಕಾಶದಿಂದ ಷಡುಸ್ಥಲವನು ಪ್ರಭುದೇವರ ವಚನಗಳಿಂದ ಸಂಕಲ್ಪಿಸಿ ಸುಲಲಿತ ವಾಕ್ಯಾಮೃತವಾಗಿ ಆ ವಚನಂಗಳನು ಟೀಕಿಸಿ ಪರಮಾರ್ಥತತ್ವಬೋಧೆಯನು ನಿರೂಪಿಸಿದ ಭೇದವೆಂತಿದ್ದೂದೆಂದಡೆ,–

ಪ್ರಥಮದಲ್ಲಿ ಪ್ರಭುದೇವರ ಪಿಂಡಸಂಭವ ಗದ್ಯ :

ನಿತ್ಯನಿರಂಜನ ಪರಂಜ್ಯೋತಿ ಆ ವಾಙ್ಮನಸಗೋಚರಮಪ್ಪ ಶ್ರೀ ಪರಮೇಶ್ವರನ ಶ್ರೀಕೈಲಾಸದಲ್ಲಿಪ್ಪ ಎಲ್ಲಾ ಶಿವಗಣಂಗಳೊಳಗೆ ಅತ್ಯಂತ ಶ್ರೇಷ್ಠನಾಗುತ್ತಿಹ ಮಾಯಾಕೋಳಾಹಳನೆಂಬ ಗಣೇಶ್ವರನೊಪ್ಪುತ್ತಿರಲು,

ಒಂದುದಿನ ಪಾರ್ವತಿದೇವಿಯರು ಪರಮೇಶ್ವರನ ಕೂಡೆ ಸಂವಾದಿಸಿ, ಈ ಮಾಯಾ ಕೋಳಾಹಳನೆಂಬ ಗಣೇಶ್ವರನು ಮಾಯೆಯ ತೊರೆದ ಪರಿಯೆಂತು? ಈತನ ಮಾಯಾಸಕ್ತನ ಮಾಡಿ ತೋರುವೆನೆಂದು ಪ್ರತಿಜ್ಞೆಯಂ ಮಾಡಿ ತನ್ನ ಓಲಗಕ್ಕೆ ವಾದ್ಯವ ಬಾರಿಸುವ ಒಬ್ಬ ರುದ್ರಕನ್ನಿಕೆಯ ಕರೆದು ನೀನು ಮಾಯಾಕೋಳಾಹಳನೆಂಬ ಗಣೇಶ್ವರನ ಸೋಲಿಸಿ ಬಾರೆಂದು ನಿರೂಪಿಸಲು, ಮಹಾಪ್ರಸಾದವೆಂದು ಕೈಕೊಂಡು ಆ ರುದ್ರಕನ್ನಿಕೆ– ಆ ಗಣೇಶ್ವರನು ಶಿವನ ಓಲಗಕ್ಕೆ ಬಪ್ಪ ದಾರಿಯೊಳು ತನ್ನ ಮಾಯಾವಿಲಾಸರೂಪ ತೋರಿ ಮೆರೆವುತ್ತಂ ಮುಂದೆ ನಿಂದಿರಲು, ಆ ಗಣೇಶ್ವರನು ಬರುತ ಆ ಕನ್ನಿಕೆಯ ರೂಪಲಾವಣ್ಯಮಂ ಕಂಡು ಮನಮುಟ್ಟಿ ಹಾರೈಸಿ; ತನ್ನತಾನೆಚ್ಚತ್ತು ಆಯೆಂದು ಬೆರಗಾಗಿ ಎನಗೀ ಮಾಯಾಧೀನ ಸಂಬಂಧಿಸಿತಲ್ಲಾ ಎನುತ ಚಿಂತಾಕ್ರಾಂತನಾಗಿ ಶಿವನೋಲಗಕ್ಕೆ ಬರಲು ಶಿವನು ಆ ಗಣೇಶ್ವರನ ಸ್ಥಿತಿಯನರಿದು ನೀನು ಮಾಯೆಗೆ ಮನಸೋಲ್ತ ಕಾರಣ ಮಾಯಾಧೀನನಾಗಿ ಮರ್ತ್ಯದಲ್ಲಿ ಹುಟ್ಟು ಹೋಗೆನಲು, ದೇವಾ ನಾನು ಮರ್ತ್ಯದಲ್ಲಿ ಹುಟ್ಟಿ ನಿಮ್ಮನೆಂತು ಅರಿವೆನೆನಲು ಅದಕ್ಕೆ "ನೀನಂಜದಿರು ನಾನು ನಿನ್ನ ಮುಸುಕಿದ ಮಾಯೆಯಂ ನಿವೃತ್ತಿ ಮಾಡಿ ನಿನ್ನ ಸಂಸಾರಬಂಧನಮಂ ಬಿಡಿಸಿ ನಿನ್ನ ಅಂತರಂಗದಲ್ಲಿ ಜ್ಞಾನಗುರುಮೂರ್ತಿಯಾಗಿ ಬಹಿರಂಗದಲ್ಲಿ ಅನುಮಿಷನೆಂಬ ಗುರುಮೂರ್ತಿಯಾಗಿ ನಿನ್ನ ಕರಸ್ಥಲಕ್ಕೆ ಮಹಾಲಿಂಗಮಂ ತೋರಿಸಿಕೊಟ್ಟು ಸದ್ಯೋನ್ಮುಕ್ತನ ಮಾಡಿದಪ್ಪೆನು. ನೀನು ಮರ್ತ್ಯದಲ್ಲಿ ಹೋಗಿ ಶ್ರೀ ವೀರಶೈವಾಚಾರಕ್ಕೆ ಪ್ರಥಮಾಚಾರ್ಯಪುರುಷನಾದಪ್ಪೆ ನಿನ್ನಿಂದ ಮರ್ತ್ಯಲೋಕದ ಮಹಾಗಣಂಗಳೆಲ್ಲರೂ ಕೃತಾರ್ಥರಾದಪ್ಪರು, ಹೋಗೆಂದು" ಶಿವನು ಅಭಯಹಸ್ತಮಂ ಕುಡಲು ಮಹಾಪ್ರಸಾದವೆಂದನುಜ್ಞೆಯಂ ಕೈಕೊಂಡು,

ಮಾನವಾಕಾರ ಚೈತನ್ಯಕಳೆಯಂ ಧರಿಸಿ ಮೇರುವಿಂ ದಕ್ಷಿಣಭಾಗೆಯ ಜಂಬೂದ್ವೀಪಮಧ್ಯದೊಳೊಪ್ಪುತ್ತಿರ್ಪ ದೇಶಂಗಳ ಮಧ್ಯದೊಳು ಮೆರೆವ ಬೆಳುವಲದೇಶದಿಂ ದಕ್ಷಿಣ ಪ್ರಾಂತದೊಳಿಪ್ಪ ಬನವಸಿಯೆಂಬ ಗ್ರಾಮದೊಳು ನಾಗವಾಸಾಧಿಪತಿಯೆಂಬ ಶಿವಭಕ್ತನ ಸತಿ ಸುಜ್ಞಾನದೇವಿಯ ಬಸುರಲ್ಲಿ ಕಳಾಪ್ರವೇಶಿತನಾಗಿ ಜನಿಸಿ ಅಲ್ಲಮನೆಂಬ ನಾಮಮಂ ಧರಿಸಿ ಇರಲು, ಆ ರುದ್ರಕನ್ನಿಕೆಯೂ ಶಿವನ ನಿರೂಪದಿಂದ ಆ ಪುರದಲ್ಲಿ ಒಬ್ಬ ಶಿವಭಕ್ತನ ಬಸುರೊಳು ಜನಿಸಿ ಕಾಮಲತೆಯೆಂಬ ನಾಮಮಂ ಧರಿಸಿ ಇರಲು.

ಆ ಸ್ತ್ರೀಗೆ ತಾನು ಪುರುಷನಾಗಿ ಸುಖಸಂಕಥಾವಿನೋದದಿಂ ಕೆಲವು ಸಂವತ್ಸರಂಗಳಂ ಕಳೆಯೆ, ಆ ಕಾಮಲತೆಯೂ ವಿಶಾಪವನೆಯ್ದೆ, ತನಗೆಯೂ ಶ್ರೀ ಪರಮೇಶ್ವರನ ಕರುಣ ಪ್ರಸನ್ನಮಪ್ಪ ಕಾಲದೊಳು ಅಲ್ಲಮಪ್ರಭುರಾಯನ ಸತ್ಪಿಂಡದೊಳಡಗಿರ್ದ ಶಿವತತ್ವದ ನಿದರ್ಶನವೆಂತಿರ್ದುದೆಂದಡೆ ಪ್ರಥಮದಲ್ಲಿ ಪಿಂಡಸ್ಥಲವಾದುದು.

## ಪಿಂಡಸ್ಥಲ

೧

ಶಿಲೆಯೊಳಗಣ ಪಾವಕನಂತೆ ಉದಕದೊಳಗಣ ಪ್ರತಿಬಿಂಬದಂತೆ,
ಬೀಜದೊಳಗಣ ವೃಕ್ಷದಂತೆ ಶಬ್ದದೊಳಗಣ ನಿಶ್ಶಬ್ದದಂತೆ,
ಗುಹೇಶ್ವರಾ ನಿಮ್ಮ ಶರಣಸಂಬಂಧ ॥೧॥

೨

ಕಲ್ಲೊಳಗಣ ಕಿಚ್ಚು ಉರಿಯದಂತೆ, ಬೀಜದೊಳಗಣ ವೃಕ್ಷ ಉಲಿಯದಂತೆ,
ತೋರಲಿಲ್ಲಾಗಿ ಬೀರಲಿಲ್ಲಾರಿಗೆಯು,
ಗುಹೇಶ್ವರ ನಿಂದ ನಿಲವ ಅನುಭ(ಭಾ?)ವ ಸುಖಿ ಬಲ್ಲ. ॥೨॥

೩

ಜಲದೊಳಗಿರ್ದ ಕಿಚ್ಚು ಜಲವ ಸುಡದೆ,
ಜಲವು ತಾನಾಗಿಯೆ ಇದ್ದಿತ್ತು ನೋಡಾ,
ನೆಲೆಯನರಿದು ನೋಡಿಹೆನೆಂದಡೆ, ಅದು ಜಲವು ತಾನಲ್ಲ,
ಕುಲದೊಳಗಿರ್ದು ಕುಲವ ಬೆರಸದೆ, ನೆಲೆಗಟ್ಟುನಿಂದುದನಾರು ಬಲ್ಲರೊ?
ಹೊರಗೊಳಗೆ ತಾನಾಗಿರ್ದು – ಮತ್ತೆ ತಲೆದೋರದಿಪ್ಪುದು,
ಗುಹೇಶ್ವರಾ ನಿಮ್ಮ ನಿಲವು ನೋಡಾ. ॥೩॥

೪

ನೆಲದ ಮರೆಯ ನಿಧಾನದಂತೆ, ಮುಗಿಲ ಮರೆಯಲಡಗಿದ ಮಿಂಚಿನಂತೆ,
ಬಯಲ ಮರೆಯಲಡಗಿದ ಮರೀಚನಂತೆ (ಮರೀಚಿಯಂತೆ?)
ಕಂಗಳ ಮರೆಯಲಡಗಿದ ಬೆಳಗಿನಂತೆ – ಗುಹೇಶ್ವರಾ ನಿಮ್ಮ ನಿಲವು! ॥೪॥

ಸೂತ್ರ: ಇಂತಪ್ಪ ಮಹತ್ ಪಿಂಡಸ್ಥಲವು ತನ್ನ ಲೀಲೆಯಿಂ ತನ್ನೊಳಡಗಿದ ಸಕಳ ನಿಃಕಳಾತ್ಮಕತತ್ವಂಗಳನ್ನುಂಟುಮಾಡಿ ತೋರಬೇಕೆಂದು ಇಚ್ಛೈಸಲು ಅಲ್ಲಿ ಜ್ಞಾನೋದಯವಾಗಿತ್ತಾಗಿ ಮುಂದೆ ಪಿಂಡಜ್ಞಾನಸ್ಥಲವಾದುದು.

## ಪಿಂಡಜ್ಞಾನಸ್ಥಲ

೫

ಆದಿ ಆಧಾರವಿಲ್ಲದಂದು, ಹಮ್ಮುಬಿಮ್ಮುಗಳಿಲ್ಲದಂದು
ಸುರಾಳನಿರಾಳವಿಲ್ಲದಂದು, ಸಚರಾಚರವೆಲ್ಲ ರಚನೆಗೆ ಬಾರದಂದು,
ಗುಹೇಶ್ವರಾ ನಿಮ್ಮ ಶರಣನುದಯಿಸಿದನಂದು. ॥೧॥

೬

ನಾದಬಿಂದುಗಳಿಲ್ಲದಂದು ನಿರ್ಭಯನೆಂಬ ಗಣೇಶ್ವರನು,
ಉತ್ಪತ್ತಿ ಸ್ಥಿತಿ ಲಯವಿಲ್ಲದಂದು ಅಕ್ಷಯನೆಂಬ ಗಣೇಶ್ವರನು,
ಓದು ವೇದಂಗಳಿಲ್ಲದಂದು ಓಂಕಾರನೆಂಬ ಗಣೇಶ್ವರನು,
ಯುಗಜುಗಂಗಳಿಲ್ಲದಂದು ಊರ್ಧ್ವಮುಖನೆಂಬ ಗಣೇಶ್ವರನು,
ಗುಹೇಶ್ವರಲಿಂಗವಿಲ್ಲದಂದು ನಿರ್ಮಾಯನೆಂಬ ಗಣೇಶ್ವರನು. ॥೨॥

೭

ಅಯ್ಯಾ ಜಲ, ಕೂರ್ಮ, ಗಜ, ಫಣಿಯ ಮೇಲೆ
ಧರೆ ವಿಸ್ತರಿಸಿ ನಿಲ್ಲದಂದು, ಗಗನವಿಲ್ಲದಂದು,
ಪವನನ ಸುಳುಹಿಲ್ಲದಂದು, ಅಗ್ನಿಗೆ ಕಳೆದೋರದಂದು,
ತರು ಗಿರಿ ತೃಣ ಕಾಷ್ಠಾದಿಗಳಿಲ್ಲದಂದು,
ಯುಗ ಜುಗ, ಮಿಗಿಲೆನಿಸಿದ ಹದಿನಾಲ್ಕು ಭುವನ ನೆಲೆಗೊಳ್ಳದಂದು,
ನಿಜವನರಿದೆನೆಂಬ ತ್ರಿಜಗಾಧಿಪತಿಗಳಿಲ್ಲದಂದು
ತೋರುವ ಬೀರುವ ಭಾವದ ಪರಿ,
ಭಾವದಲ್ಲಿ ಭರಿತ, ಅಗಮ್ಯ ಗುಹೇಶ್ವರ ನಿರಾಳವು ! ॥೩॥

೮

ಅಯ್ಯಾ ನೀನು ನಿರಾಳ ನಿರ್ಮಾಯನಾಗಿಪ್ಪೆಯಾಗಿ –
ಆಕಾಶ ಪ್ರಕಾಶವಿಲ್ಲದಂದು, ಸಾಕ್ಷಿ ಸಭೆಗಳಿಲ್ಲದಂದು
ಸಚರಾಚರವೆಲ್ಲ ರಚನೆಗೆ ಬಾರದಂದು;
ಆಧಾರದೊಳಗಣ ವಿಭೂತಿಯನೆ ತೆಗೆದು, ಭೂಮಿಯ ನೆಲೆಗೊಳಿಸಿ (ಸೆ?)
ಪಂಚಾಶತ್‌ಕೋಟಿ ವಿಸ್ತೀರ್ಣ ಭೂಮಂಡಲಕ್ಕೆ
ಸುತ್ತಿ ಹರಿದವು ಸಪ್ತಸಾಗರಂಗಳು.
ಎಂಬತ್ತಾರು ಕೋಟಿಯ (ಯುಂ?) ತೊಂಬತ್ತೇಳುಲಕ್ಷ ಕಾಲ
ಭವನ ಮಂಡಲಕ್ಕೆ ಉದಯ ಬ್ರಹ್ಮಾಂಡ.
ಅರುವತ್ತಾರು ಕೋಟಿ ತಾರಾಮಂಡಲವೆಂದೆಡೆ.
ಬೆಳಗಿ ತೋರಿದ ಹನ್ನೆರಡು ಜ್ಯೋತಿಯ
ನಿಲಿಸಿ ತೋರಿದ ಹದಿನಾಲ್ಕು ಭುವನವ –
ಈ ಜಗದ ಜಂಗುಳಿಯ ಕಾವ ಗೋವಳ ತಾನಾಗಿ
ಚೌರಾಸಿಲಕ್ಷ ಜೀವರಾಶಿಗಳಿಗೆ ರಾಶಿವಾಳ ತಾನಾಗಿ
ಸಕಲದ ಅಳಿವಿನ ಉಳಿವಿನ ನಿಜದ ನಿಲವ ನೋಡಿ ಕಂಡೆನು.
ಗುಹೇಶ್ವರಾ, ನಿಮ್ಮ ಶ್ರೀಪಾದಕೆ ನಮೋ ನಮೋ ಎನುತಿರ್ದೆನು. ॥೪॥

೯

ತಲೆ ಇಲ್ಲದ ತಲೆಯಾತಂಗೆ ಕರುಳಿಲ್ಲದ ಒಡಲು ನೋಡಾ!
ಆ ನಲ್ಲಂಗೆ ಅಂಗವಿಲ್ಲದ ಅಂಗನೆ ಸತಿಯಾಗಿಪ್ಪಳು!
ಇವರಿಬ್ಬರ ಬಸುರಲ್ಲಿ ಹುಟ್ಟಿದಳೆಮ್ಮ ತಾಯಿ,
ನಾ ಹುಟ್ಟಿ, ತಾಯ ಕೈವಿಡಿದು ಸಂಗವ ಮಾಡಿ
ನಿರ್ದೋಷಿಯಾದೆನು ಕಾಣಾ ಗುಹೇಶ್ವರಾ. ॥೫॥

೧೦

ಎನ್ನ ನಾನರಿಯದಂದು ಮುನ್ನ ನೀನೇನಾಗಿರ್ದೆ ಹೇಳಾ?
ಮುನ್ನ [ನೀ] ಬಾಯ ಮುಚ್ಚಿಕೊಂಡಿರ್ದೆ ಎಂಬುದ,
ನಾ ನಿನ್ನ ಕಣ್ಣಿಂದ ಕಂಡೆನು,
ಎನ್ನ ನಾನರಿದ ಬಳಿಕ ಇನ್ನು ನೀ ಬಾಯಿದೆರೆದು ಮಾತನಾಡಿದಡೆ
ಅದನೆನ್ನ ಕಣ್ಣಿಂದ ಕಂಡು ನಾಚಿದೆ ನೋಡಾ.
ಎನ್ನ ಕಾಬ ನಿನಗೆ, ನಿನ್ನ ಕಾಬ ಎನಗೆ, ಸಂಬಂಧ ಒಂದೇ ನೋಡಾ!
ಗುಹೇಶ್ವರಾ ನಿನ್ನ ಬೆಡಗಿನ ಬಿನ್ನಾಣವ ನಾನರಿದೆ ನೋಡಾ. ॥೬॥

೧೧

ಮಾಯದ ಬಲೆಯಲ್ಲಿ ಸಿಲುಕಿದ ಮರುಳ ನಾನೆಂದರಿದ ಪರಿಯ ನೋಡಾ !
ಲಿಂಗವೆಂದರಿದ ಪರಿಯ ನೋಡಾ !
ತನ್ನ ವಿನೋದಕ್ಕೆ ಬಂದು (ದ?) ನಿಶ್ಚಿಂತ ನಿರಾಳ
ಗುಹೇಶ್ವರನೆಂದರಿದ ಪರಿಯ ನೋಡಾ. ॥೭॥

ಸೂತ್ರ: ಇಂತು ತನ್ನ ಪಿಂಡಜ್ಞಾನದ ಲೀಲೆಯಿಂದಾದ ಮಾಯಾಮಹದಾದಿ ಪ್ರಪಂಚು ತನಗೆ ಅನ್ಯವಾಗಿರಲು, ಆ ಮಾಯೆಯ ತಾನರಿದು ಬೇರ್ಪಡಿಸಿ ನಿವೃತ್ತಿ ಮುಖದಿಂದ ವಿಡಂಬಿಸುತ್ತಿರಲು ಮುಂದೆ ಮಾಯಾವಿಲಾಸವಿಡಂಬನಸ್ಥಲವಾದುದು.

## ಮಾಯಾವಿಲಾಸವಿಡಂಬನಸ್ಥಲ

೧೨

ಕಾಯದ ಮೊದಲಿಗೆ ಬೀಜವಾವುದೆಂದರಿಯದೀ ಲೋಕ.
ಇಂದ್ರಿಯಂಗಳು ಬೀಜವಲ್ಲ.

ಆ ಕಳಾಭೇದವಲ್ಲ! ಸ್ವಪ್ನ ಬಂದೆರಗಿತ್ತಲ್ಲಾ!
ಇದಾವಂಗೂ ಶುದ್ಧ ಸುಯಿಧಾನವಲ್ಲ ಕಾಣಾ ಗುಹೇಶ್ವರಾ. ॥೧॥

೧೩

ಅಂಡಜವೆಂಬ ತತ್ತಿಯೊಡೆದು ಪಿಂಡ ಪಲ್ಲಟವಾಗಿ
ಗಂಡಗಂಡರನರಸಿ ತೊಳಲುತ್ತೈದಾರೆ.
ಖಂಡಮಂಡಲದೊಳಗೆ ಕಂಡೆನೊಂದು ಚೋದ್ಯವ:
ಕಂದನ ಕೈಯ ದರ್ಪಣವ ಪ್ರತಿಬಿಂಬ ನುಂಗಿತ್ತು.
ದಿವರಾತ್ರಿಯುದಯದ ಬೆಳಗನು ಕತ್ತಲೆ ನುಂಗಿತ್ತು.
ಗುಹೇಶ್ವರನಲ್ಲಿಯೆ ನಿರ್ವಯಲಾಗಿತ್ತು. ॥೨॥

೧೪

ರಕ್ಕಸಿಗಿಬ್ಬರು ಮಕ್ಕಳು, ತೊಟ್ಟಿಲ ಮೇಲೈವರು,
ರಕ್ಕಸಿ ಬಾಣತಿಯಾದಡೆ ಮಕ್ಕಳಿಗಿನ್ನೆಂತೊ !
ತೊಟ್ಟಿಲ ತೂಗುವೆ ಜೋಗುಳವಾಡುವೆ
ರಕ್ಕಸಿಬಾಣತಿಯ ತೊಟ್ಟಿಲು ನುಂಗಿತ್ತು – ಇದೇನು ಹೇಳಾ ಗುಹೇಶ್ವರಾ ? ॥೩॥

೧೫

ಗಗನದ ಮೇಲೊಂದು ಅಭಿನವ ಗಿಳಿ ಹುಟ್ಟಿ
ಸಯ ಸಂಭ್ರಮದಲ್ಲಿ ಮನೆಯ ಮಾಡಿತ್ತು
ಬ್ರಹ್ಮನಾ ಗಿಳಿಗೆ ಹಂಜರವಾದ, ವಿಷ್ಣು ಆ ಗಿಳಿಗೆ ಕೊರೆವ ಕೂಳಾದ
ರುದ್ರನಾ ಗಿಳಿಗೆ ತಾ ಕೋಳಾದ (ಕೋಳುವೋದ ?)
ಇಂತೀ ಮೂವರ ಮುಂದಣ ಕಂದನ ನುಂಗಿ
ದೃಷ್ಟನಾಮ ನಷ್ಟವಾಯಿತ್ತು – ಇದೆಂತೊ ಗುಹೇಶ್ವರಾ ? ॥೪॥

೧೬

ನೆಲದ ಬೊಂಬೆಯ ಮಾಡಿ, ಜಲದ ಬಣ್ಣವನುಡಿಸಿ,
ಹಲವು ಪರಿಯಾಶಿ(ಶ್ರ?)ಮದಲ್ಲಿ ಉಲಿವ ಗೆಜ್ಜೆಯ ಕಟ್ಟಿ
ವಾಯುವನಲನ ಸಂಚಕ್ಕೆ ಅರಳೆಲೆಯ ಶೃಂಗಾರವ ಮಾಡಿ
ಆಡಿಸುವ ಯಂತ್ರವಾಹಕನಾರೊ ?
ಬಯಲ ಕಂಬಕ್ಕೆ ತಂದು ಸಯವೆಂದು ಪರವ ಕಟ್ಟಿದಡೆ
ಸಯವದ್ವಯವಾಯಿತ್ತು – ಏನೆಂಬೆನು ಗುಹೇಶ್ವರಾ ! ॥೫॥

೧೬

ಇಪ್ಪತ್ತೈದು ತಲೆಯೊಳಗೆ, ಏಳು ಮೊಲೆ ಮುಖವೆಂಟು,
ಹರಿನಾಲ್ಕು ಬಾಯಿ ನೂರಿಪ್ಪತ್ತು ಕೋರೆದಾಡೆ.
ಹೃದಯದಲ್ಲಿ ಹುದುಗಿದ ಅಗ್ನಿಯ ತೆಗೆದು ಮುದ್ದಾಡಿಸಿ (ಸೆ ?)
ದನಿಯ ಧರ್ಮವ ನುಂಗಿ ಮನದ ಬಣ್ಣಗಳಡಗಿ
ಹೆತ್ತ ತಾಯಿ ಮಗನ ನುಂಗಿ, ಶಿಶು ತಾಯ ಬೆಸಲಾಗಿ
ಗುಹೇಶ್ವರನೆಂಬ ನಿಲವ ಅಂಗಯ್ಯ ಮೊಲೆ ನುಂಗಿತ್ತು. ॥೬॥

೧೭

ಜಂಬೂದ್ವೀಪದ ವ್ಯವಹಾರಿ ಖಂಡ ಭಂಡವ ತುಂಬಿ
ಕುಂಭಿನಿಯುದರದ ಮೇಲೆ ಪಸರವನಿಕ್ಕಿದ.
ಉಷ್ಣ ತೃಷ್ಣೆ ಘನವಾಗಿ. ಕಡಲೇಳು ಸಮುದ್ರವ ಕುಡಿದು
ನೀರಡಿಸಿದಾತ ಅರಲುಗೊಂಡು ಬೆರಗಾದ.
ಶಿಶು ತಾಯ ಹೆಣನ ಹೊತ್ತುಕೊಂಡು ಹೆಸರ ಹೇಳುತ್ತೈದಾನೆ !
ಗುಹೇಶ್ವರನೆಂಬ ನಿಲವ ವಸುಧೆಯಾಕೃತಿ ನುಂಗಿತ್ತು. ॥೭॥

೧೮

ಭೂಮಿಯ ಕಠಣವನು, ಆಕಾಶದ ಮೃದುವನು; ತಿಳಿವ ಗಮನ
ಅಲ್ಲಿಯೇ ನಿಂದಿತ್ತು.
ಉದಕದೊಳಗೆ ಹುಟ್ಟಿದ ತೃಷ್ಣೆ ಉದಕವನರಸಿತ್ತಲ್ಲಾ!
ಒಳಗೆ ಸತ್ತು ಹೊರಗೆ ಆಡುತ್ತದೆ !
ಗುಹೇಶ್ವರ ಬೆರಗಾಗಿ ಅಲ್ಲಿಯೇ ನಿಂದನು. ॥೮॥

೨೦

ಭೂಮಿಯಾಕಾಶ ಒಂದು ಜೀವನದುದರ.
ಅಲ್ಲಿ ಘನವೇನು ಘನವೆನ್ನದವಂಗೆ? ಕಿರಿದೇನು ಕಿರಿದೆನ್ನದವಂಗೆ ?
ಆ ಘನವು ಮನಕ್ಕೆ ಗಮಿಸಿದಡೆ. ಇನ್ನು ಸರಿಯುಂಟೆ ಗುಹೇಶ್ವರಾ ? ॥೯॥

೨೧

ಬ್ರಹ್ಮ ಪಾಶ. ವಿಷ್ಣು ಮಾಯೆ ಎಂಬ ಬಲೆಯ ಬೀಸಿ.
ಹೊನ್ನು ಹೆಣ್ಣು ಮಣ್ಣು ತೋರಿ. ಮುಕ್ಕಣ್ಣನಾಡಿದ ಬೇಂಟೆಯ.
ಆಸೆಯೆಂಬ ಕುಟುಕನಿಕ್ಕಿ. ಹೇಸದೆ ಕೊಂದೆಯಲ್ಲಾ ಗುಹೇಶ್ವರಾ. ॥೧೦॥

೨೨

ಬ್ರಹ್ಮ ಘನವೆಂದಡೆ ಬ್ರಹ್ಮನ ನುಂಗಿತ್ತು ಮಾಯೆ
ವಿಷ್ಣು ಘನವೆಂದಡೆ ವಿಷ್ಣುವ ನುಂಗಿತ್ತು ಮಾಯೆ
ರುದ್ರ ಘನವೆಂದಡೆ ರುದ್ರನ ನುಂಗಿತ್ತು ಮಾಯೆ
ತಾ ಘನವೆಂದಡೆ ತನ್ನ ನುಂಗಿತ್ತು ಮಾಯೆ
ಸರ್ವವೂ ನಿನ್ನ ಮಾಯೆ !
ಒಬ್ಬರನ್ನೊಳಕೊಂಡಿತ್ತೆ ಹೇಳಾ ಗುಹೇಶ್ವರಾ ? ॥೧೧॥

೨೩

ದೇವರೆಲ್ಲರ ಹೊಡೆತಂದು ದೇವಿಯರೊಳಗೆ ಕೂಡಿತ್ತು ಮಾಯೆ,
ಹರಹರಾ ಮಾಯೆ ಇದ್ದೆಡೆಯ ನೋಡಾ.
ಶಿವಶಿವಾ ಮಾಯೆ ಇದ್ದೆಡೆಯ ನೋಡಾ.
ಎರಡೆಂಬತ್ತುಕೋಟಿ ಪ್ರಮಥಗಣಂಗಳು, ಅಂಗಾಲ ಕಣ್ಣವರು
ಮೈಯೆಲ್ಲಾ ಕಣ್ಣವರು, ನಂದಿ ವಾಹನ ರುದ್ರರು – ಇವರೆಲ್ಲರು,
ಮಾಯೆಯ ಕಾಲಗಾಹಿನ ಸರಮಾಲೆ ಕಾಣಾ ಗುಹೇಶ್ವರಾ. ॥೧೨॥

೨೪

ಆಡಂಬರದೊಳಗಾಡಂಬರವಿದೇನೊ?
ಹಾರಿತ್ತು ಬ್ರಹ್ಮನೋಲಗ, ಕೆದರಿತ್ತಿದೇನಯ್ಯಾ ?
'ಸಾರು ಸಾರು' ಎನ್ನುತ್ತ ವಿಷ್ಣು ಅಜರ ನುಂಗಿ
ರುದ್ರಯೋನಿಯೊಳಡಗಿತ್ತಿದೇನೊ !
ಬೇರಿಲ್ಲದ ಮರ, ನೀರಿಲ್ಲದ ನೆಳಲೊಳಗೆ
ತೋರಿದ ಪ್ರತಿಬಿಂಬವ ನಾನೇನೆಂಬೆನು ಗುಹೇಶ್ವರಾ ? ॥೧೩॥

೨೫

ಚಂದ್ರಮನೊಳಗಣ ಎರಳೆಯ ನುಂಗಿದ ರಾಹುವಿನ ನೋಟವು,
ಅಂದಂದಿಗೆ ಬಂದು ಕಾಡಿತ್ತು ನೋಡಾ.
ಒಂದರ ತಲೆ, ಒಂದರ ಬಸುರು – ಅಂದಂದಿಗೆ ಬಂದು ಕಾಡಿತ್ತು ನೋಡಾ.
ನಂದಿ ನಂದಿಯ ನುಂಗಿ ಬಂದುದು ಮಹೀತಳಕ್ಕಾಗಿ,
ಇಂದು, ರವಿಗಡಣವ ನಾನೇನೆಂಬೆ ಗುಹೇಶ್ವರಾ. ॥೧೪॥

೨೬

ಊರ ಮಧ್ಯದ ಕಣ್ಣ ಕಾಡಿನೊಳಗೆ, ಬಿದ್ದ್ದಾವೆ ಐದು ಹೆಣನು.
ಬಂದು ಬಂದು ಆಳುವರು.
ಬಳಗ ಘನವಾದ ಕಾರಣ—ಹೆಣನೂ ಬೇಯದು ಕಾಡೂ ನಂದದು.
ಮಾಡ ಉರಿಯಿತ್ತು ಗುಹೇಶ್ವರಾ. ॥೧೫॥

೨೭

ಹುಲಿಯ ಬೆನ್ನಲ್ಲಿ ಒಂದು ಹುಲ್ಲೆ ಹೋಗಿ, ಮೇದು ಬಂದೆನೆಂದಡೆ,
ಇದ ಕಂಡು ಬೆರಗಾದೆ.
ರಕ್ಕಸಿಯ ಮನೆಗೆ ಹೋಗಿ ನಿದ್ರೆಗೈದು ಬಂದೆನೆಂದಡೆ,
ಇದ ಕಂಡು ಬೆರಗಾದೆ.
ಜವನ ಮನೆಗೆ ಹೋಗಿ ಸಾಯದೆ ಬದುಕಿ ಬಂದೆನೆಂದಡೆ,
ಇದ ಕಂಡು ಬೆರಗಾದೆ—ಗುಹೇಶ್ವರಾ. ॥೧೬॥

೨೮

ಹೃದಯಕಂದದ ಮೇಲೆ ಹುಟ್ಟಿತ್ತು,
ಹರಿದು ಹಬ್ಬಿ ಕೊಬ್ಬಿ ಹಲವು ಫಲವಾಯಿತ್ತು—ನೋಡಿರೆ !
ಪರಿಪರಿಯ ಫಲಂಗಳನು ಬೇಡಿದವರಿಗಿತ್ತು,
ಆ ಫಲವ ಬಯಸಿದವರು ಜಲದೊಳಗೆ ಬಿದ್ದಡೆ
[ನೋಡಿ] ನಗುತ್ತಿರ್ದೆನು—ಗುಹೇಶ್ವರಾ. ॥೧೭॥

೨೯

ಪಂಚಾಶತ್‌ಕೋಟಿ ಭೂಮಂಡಲವನು,
ಒಂದು ತಲೆಯಿಲ್ಲದ ಮುಂಡ ನುಂಗಿತ್ತ ಕಂಡೆನು.
ತಲೆಯಿಲ್ಲದೆ ಕಂಡು ಬೆರಗಾದೆನು
ನವಖಂಡ ಮಂಡಲ ಭಿನ್ನವಾದಂದು—
ಆ ತಲೆಯ ಕಂಡವರುಂಟೆ ಗುಹೇಶ್ವರಾ ? ॥೧೮॥

೩೦

ಅರಗಿನ ಪುತ್ಥಳಿಯನುರಿ ಕೊಂಡಡೆ, ಉದಕ ಬಾಯಾರಿ ಬಳಲುತ್ತಿದೆ
[ಅಗೆಯಿಂ ಭೋ ಬಾವಿಯನಗೆಯಿಂ ಭೋ]

ಬಾವಿಯನಗೆದಾತ ಸತ್ತ, ಬಾವಿ ಬತ್ತಿತ್ತು – ಇದು ಕಾರಣ,
ಮೂರು ಲೋಕವು ಬರುಸೂರೆವೋಯಿತ್ತು ಗುಹೇಶ್ವರಾ. ॥೧೯॥

೩೧

ಅಂಗದ ಕೊನೆಯ ಮೇಲಣ ಕೋಡಗ ಕೊಂಬಿಗೆ ಹಾರಿತ್ತು,
ಅಯ್ಯಾ ಇದು ಸೋಜಿಗ !–
ಕಯ್ಯ ನೀಡಲು ಮೈಯೆಲ್ಲವನು ನುಂಗಿತ್ತು
ಒಯ್ಯನೆ ಕರೆದಡೆ ಮುಂದೆ ನಿಂತಿತ್ತು
ಮುಯ್ಯಾಂತಡೆ ಬಯಲಾಯಿತ್ತು – ಗುಹೇಶ್ವರಾ ! ॥೨೦॥

೩೨

ಭೂತ ಭೂತವ ಕೂಡಿ ಅದ್ಭುತವಾಯಿತ್ತು,
ಕಿಚ್ಚು ಕೋಡಿತ್ತು, [ನೀರು] ನೀರಡಿಸಿತ್ತು – ಅದ್ಭುತವಾಯಿತ್ತು !
ಉರಿ, ಪವನದೋಷದೊಳಡಗಿರ್ದು
ವಾಯುವಿಮ್ಮಡಿಸಿತ್ತ ಕಂಡೆ, ಗುಹೇಶ್ವರಾ. ॥೨೧॥

೩೩

ಅಡವಿಯೊಳಗೆ ಕಳ್ಳರು ಕಡವಸಿದ್ಧ (ಕಡವಸದ?) ಸ್ವಾಮಿಯನು
ಹುಡುಕಿ ಹುಡುಕಿ ಅರಸುತ್ತೈದಾರೆ. – ಸೊಡರು ನಂದಿ ಕಾಣದೆ !
ಅನ್ನ ಪಾನದ ಹಿರಿಯರೆಲ್ಲರು ತಮ್ಮ ತಾವರಿಯದೆ,
ಅಧರಪಾನವನುಂಡು ತೇಗಿ, ಸುರಾಪಾನವ ಬೇಡುತ್ತೈದಾರೆ.
ಅರಿದ ಹಾರುವನೊಬ್ಬನು ಅರಿದ ತಲೆಯ ಹಿಡಿದುಕೊಂಡು,
ಅಧ್ಯಾತ್ಮವಿಕಾರದ ನೆತ್ತರ ಕುಡಿದನು ನೋಡಾ – ಗುಹೇಶ್ವರಾ. ॥೨೨॥

೩೪

ಮುಗಿಲ ಬಣ್ಣದ ಪಕ್ಷಿ ಮಗನ ಕೈಯ ಅರಗಿಳಿ,
ಗಗನ[ದ] ಕೋಲಂಬಿನಲ್ಲಿ ಸ್ವಪ್ನದ ನಿಲವನು ತೆಗೆದೆಚ್ಚವನಾರೊ ?
ಉಪಮಿಸಬಾರದು !
ಜಾಗ್ರ ಸ್ವಪ್ನ ಸುಷುಪ್ತಿಯ ನಡುವೆ ತ್ರಿಜಗವಾಯಿತ್ತು.
ಜಗಜ್ಯೋತಿ, ನಿನ್ನ ಮಾಯೆಯನೇನೆಂಬೆನು ಗುಹೇಶ್ವರಾ. ॥೨೩॥

೩೫

ಕಡಲ ನುಂಗಿದ ಕಪ್ಪಿನ ಪರಿಭವ ನವಸಾಸಿರ !
ಸಿಡಿಲು ಹೊಯ್ದು ಬಯಲಿಂಗೆ ಬಣ್ಣವುಂಟೆ ?
ಕಂಗಳ ಮುಂದಣ ಕನಸು ಹಿಂಗಿದ ತುಂಬಿಯ ಪರಿಮಳ !
ಅಂಗವಿಲ್ಲದ ರೂಹಿಂಗೆ ಸಂಗವುಂಟೆ ? – ಇದೇನೋ !
ಗಗನದ ಹಣ್ಣನೆ ಕೊಯ್ದು, ಮುಗುದೆ ರುಚಿಯನರಿಯಳು !
ಹಗರಣದಮ್ಮಾವಿನ ಹಯನು ಸಯವಪ್ಪುದೆ ಗುಹೇಶ್ವರಾ ? ॥೨೪॥

೩೬

ಮಾಯದ ಕೈಯಲಿ ಓಲೆ ಕಂಠವ ಕೊಟ್ಟಡೆ,
ಲಗುನ ವಿಗುನವ ಬರೆಯಿತ್ತು ನೋಡಾ
ಅರಗಿನ ಪುತ್ಥಳಿಗೆ ಉರಿಯ ಸೀರೆಯನುಡಿಸಿದಡೆ,
ಅದು ಸಿರಿಯ ಸಿಂಗಾರವಾಯಿತ್ತು ನೋಡಾ.
ಅಂಬರದೊಳಗಾಡುವ ಗಿಳಿ ಪಂಜರದೊಳಗಣ ಬೆಕ್ಕ ನುಂಗಿ
ರಂಭೆಯ ತೋಳಿಂದ ಅಗಲಿತ್ತು ನೋಡಾ–ಗುಹೇಶ್ವರಾ. ॥೨೫॥

೩೭

ಹಿರಿದಪ್ಪ ಜಲಧಿಯ ಮಡುವಿನೊಳಗೆ,
ಕರಿಯ ಕಬ್ಬಿಲ ಜಾಲವ ಬೀಸಿದ ನೋಡಯ್ಯಾ.
ಅರಿದ ತಲೆ ಐದು, ಅರಿಯದ ತಲೆ ಐದು, ಕರಿಯ ತಲೆ ಐದು,
ಮುಂದೈದಾವೆ ನೋಡಯ್ಯಾ.
ಕರಿಯ ಕಬ್ಬಿಲ ಜಾಲವ ಹೊತ್ತುಕೊಂಡು ಹೋದಡೆ
ನೇತ್ರದಲೋಕುಳಿಯಾಡಿತ್ತ ಕಂಡೆನು ಗುಹೇಶ್ವರಾ. ॥೨೬॥

೩೮

ಕೋಣನ ಕೊಂಬಿನ ತುದಿಯಲ್ಲಿ, ಏಳುನೂರೆಪ್ಪತ್ತು ಸೇದೆಯ ಬಾವಿ.
ಬಾವಿಯೊಳಗೊಂದು ಬಗರಿಗೆ, ಬಗರಿಗೆಯೊಳಗೊಬ್ಬ ಸೂಳೆ ನೋಡಯ್ಯಾ.
ಆ ಸೂಳೆಯ ಕೊರಳಲ್ಲಿ ಏಳುನೂರೆಪ್ಪತ್ತು
ಆನೆ ನೇರಿತ್ತ ಕಂಡೆ ಗುಹೇಶ್ವರಾ. ॥೨೭॥

೩೯

ಹುಲಿಯ ತಲೆಯ ಹುಲ್ಲೆ, ಹುಲ್ಲೆಯ ತಲೆಯ ಹುಲಿ–
ಈ ಎರಡರ ನಡು ಒಂದಾಯಿತ್ತು !– ಹುಲಿಯಲ್ಲ ಹುಲ್ಲೆಯಲ್ಲ.
ಕೆಲದಲೊಂದು ಬಂದು ಮೆಲುಕಾಡಿತ್ತು ನೋಡಾ.
ತಲೆಯಿಲ್ಲದ ಮುಂಡ ತರಗೆಲೆಯ ಮೆದ್ದಡೆ,
ಎಲೆ ಮರೆಯಾಯಿತ್ತು, ಕಾಣಾ, ಗುಹೇಶ್ವರಾ. ॥೨೮॥

೪೦

ಕರೆಯದೆ ಬಂದುದ, ಹೇಳದೆ ಹೋದುದನಾರೂ. ಅರಿಯರಲ್ಲಾ.
ಅಂದಂದಿಂಗೆ ಬಂದ ಪ್ರಾಣಿಗಳು, ಆರೂ ಅರಿಯರಲ್ಲಾ.
ಗುಹೇಶ್ವರನೆಂಬ ಲಿಂಗವು ಉಣ್ಣದೆ ಹೋದುದನಾರೂ ಅರಿಯರಲ್ಲಾ! ॥೨೯॥

೪೧

ಆಯಿತ್ತೆ ಉದಯಮಾನ, ಹೋಯಿತ್ತೆ ಅಸ್ತಮಾನ.
ಅಳಿದವಲ್ಲಾ ನೀರಲಾದ ನಿರ್ಮಿತಂಗಳೆಲ್ಲವು !
ಕತ್ತಲೆಗವಿಯಿತ್ತು ಮೂರು ಲೋಕದೊಳಗೆ.
ಇದರಚ್ಚುಗವೇನು ಹೇಳಾ ಗುಹೇಶ್ವರಾ ? ॥೩೦॥

೪೨

ಕಾಲುಗಳೆಂಬುವು ಗಾಲಿ ಕಂಡಯ್ಯಾ
ದೇಹವೆಂಬುದು ತುಂಬಿದ ಬಂಡಿ ಕಂಡಯ್ಯಾ.
ಬಂಡಿಯ ಹೊಡೆವರೈವರು ಮಾನಿಸರು, ಒಬ್ಬರಿಗೊಬ್ಬರು ಸಮವಿಲ್ಲಯ್ಯ.
ಆದರಿಚ್ಛೆಯನರಿದು ಹೊಡೆಯದಿರ್ದಡೆ,
ಅದರಚ್ಚು ಮುರಿಯಿತ್ತು, ಗುಹೇಶ್ವರಾ. ॥೩೧॥

೪೩

ಅರಕ್ಕೆಯ ಸಿರಿಗೆ ಆರಕ್ಕೆ ಚಿಂತಿಸುವರು.
ಆರಕ್ಕೆಯ ಬಡತನಕ್ಕೆ ಆರಕ್ಕೆ ಮರುಗುವರು.
ಇದಾರಕ್ಕೆ ? ಏನಕ್ಕೆ ? –ಮಾಯದ ಬೇಳುವೆ ಹುರುಳಿಲ್ಲ.
ಕೊಂದು ಕೂಗಿತ್ತು ನೋಡಾ ಗುಹೇಶ್ವರಾ. ॥೩೨॥

೪೪

ತೋಟವ ಬಿತ್ತಿದ[ರೆಮ್ಮ]ವರು, ಕಾಹ ಕೊಟ್ಟವರು ಜವನವರು.
ನಿತ್ಯವಲ್ಲದ ಸಂಸಾರ ವೃಥಾ ಹೋಯಿತಲ್ಲಾ !
ಗುಹೇಶ್ವರನಿಕ್ಕಿದ ಕಿಚ್ಚು, ಹೊತ್ತಿಕ್ಕಲುಂಟು ಆಟ್ಟುಣಲಿಲ್ಲ ಗುಹೇಶ್ವರಾ. ॥೩೭॥

೪೫

ನಿರ್ಣಯವನರಿಯದ ಮನವೆ, ದುಗುಡವನಾಹಾರಗೊಂಡೆಯಲ್ಲಾ !
ಮಾಯಾ ಸೂತ್ರವಿದೇನೊ! ಕಂಗಳೊಳ[ಗಣ] ಕತ್ತಲೆ ತಿಳಿಯದಲ್ಲಾ !
ಬೆಳಗಿನೊಳಗಣ ಶೃಂಗಾರ ಬಳಲುತ್ತಿದ್ದುದು, ಗುಹೇಶ್ವರಾ. ॥೩೪॥

ಸೂತ್ರ: ಇಂತು ಮಾಯಾವಿಲಾಸವ ವಿಡಂಬಿಸುತ್ತಿದ್ದಾತನು, ತಾನು ಮಾಯೆಗೆ ಸಮೀಪನು, ಅದೆಂತೆಂದಡೆ: ತನಗೆ ಮಾಯೆ ಇದಿರಿಟ್ಟು ತೋರಿಹುದಾಗಿ. ತನ್ನಲ್ಲಿ ಭಿನ್ನವಿಲ್ಲವೆಂಬ ವಿಚಾರ ಹುಟ್ಟಲಾಗಿ, ತಾನೇ ಮಾಯಾವಿಕಾರಿಯೆಂದರಿದು, ಅನ್ಯವ ವಿಡಂಬಿಸುವದ ಬಿಟ್ಟು ತನ್ನ ಹೇಯೋಪಾಯವ ತಾನೇ ವಿಡಂಬಿಸುತ್ತಿರಲು ಮುಂದೆ ಸಂಸಾರಹೇಯಸ್ಥಲವಾದುದು.

## ಸಂಸಾರಹೇಯಸ್ಥಲ

೪೬

ಸಂಸಾರವೆಂಬ ಹೆಣ ಬಿದ್ದಿದ್ದಡೆ, ತಿನಬಂದ ನಾಯ ಜಗಳವ ನೋಡಿರೆ !
ನಾಯ ಜಗಳವ ನೋಡಿ ಹೆಣ[ನೆದ್ದು] ನಗುತ್ತಿದೆ.
ಗುಹೇಶ್ವರನೆಂಬ ಲಿಂಗವಲ್ಲಿಲ್ಲ ಕಾಣಿರೆ. ॥೧॥

೪೭

ಹಳ್ಳದೊಳಗೊಂದು ಹುಳ್ಳಿ ಬರುತ್ತಿರಲು, ನೊರೆ ತೆರೆಗಳು ತಾಗಿದುವಲ್ಲಾ !
ಸಂಸಾರವೆಂಬ ಸಾಗರದೊಳಗೆ ಸುಖದುಃಖಗಳು ತಾಗಿದವಲ್ಲಾ !
ಇದಕ್ಕಿದು ಮೂರ್ತಿಯಾದ ಕಾರಣ ಪ್ರಳಯವಾಯಿತ್ತು, ಗುಹೇಶ್ವರಾ. ॥೨॥

೪೮

ಮಾನವ ತೋರಿಹ ಆವಿಂಗೆ ಕೊಳಗದ ತೋರಿಹ ಕೆಚ್ಚಲು.
ತಾಳುದ್ದ (ತ಼ಾಳ ಮರದುದ್ದ ?)ವೆರಡು ಕೋಡು ನೋಡಾ !
ಆದನರಸ ಹೋಗಿ ಆರುದಿನ, ಅದು ಕೆಟ್ಟು ಮೂರುದಿನ !
ಅಘಟಿತ ಘಟಿತ ಗುಹೇಶ್ವರಾ, [ಅರಸುವ ಬಾರ್ಯೆ] ||೩||

೪೯

ಆನೆಯ ಹೆಣ ಬಿದ್ದಡೆ ಕೋಡಗ ಮುದ್ದಾಡಿಸಿತ್ತ ಕಂಡೆನಯ್ಯಾ,
ಕಾಡೊಳಗೊಬ್ಬ ಸೂಳೆ ಕರೆದು ಒತ್ತೆಯ ಕೊಂಬುದ ಕಂಡೆನಯ್ಯಾ,
ಹಾಳೂರೊಳಗೆ ನಾಯ ಜಗಳವ ಕಂಡೆ:
ಇದೇನು ಸೋಜಿಗವೊ ಗುಹೇಶ್ವರಾ ! ||೪||

೫೦

ಕುಲದಲಧಿಕನು ಹೋಗಿ ಹೊಲೆಗೇರಿಯಲ್ಲಿ ಮನೆಯ ಕಟ್ಟಿದಡೆ,
ಕುಲ ಕೆಡದಿಪ್ಪ ಈ ಪರಿಯ ನೋಡಾ !
ಆತನ ಕುಲದವರೆಲ್ಲರು ಮುಖವ ನೋಡಲೊಲ್ಲದಡೆ
ಕುಲವುಳ್ಳವರೆಲ್ಲರೂ ಕೈವಿಡಿದರು.
ಕುಲಗೆಟ್ಟವನೆಂದು ತಿಳಿದು ವಿಚಾರಿಸಲು,
ಹೊಲೆಗೆಟ್ಟು ಹೋಯಿತ್ತು ಕಾಣಾ ಗುಹೇಶ್ವರಾ. ||೫||

**ಸೂತ್ರ:** ಇಂತು ಸಂಸಾರವೆಂಬ ದುಸ್ಸಾರವ ಬೇರ್ಪಡಿಸಿ. ತನ್ನ ನಿಜವನೋಡಿಹೆನೆಂದಡೆ, ಇದಿರಿಟ್ಟಲ್ಲದೆ ತನ್ನ ಕಾಣಬಾರದಾಗಿ. ಅದೆಂತೆಂದಡೆ: ತನ್ನ ಮುಖವ ತಾನೆ ನೋಡಿಹೆನೆಂಬವನು ಇದಿರೆ ಕನ್ನಡಿಯನುಂಟುಮಾಡಿಕೊಂಡು ನೋಡುವವನಂತೆ; ತನ್ನ ಇದಿರೆ ಗುರುವನುಂಟುಮಾಡಿಕೊಂಡು, ಉಪಾಸ್ತಿಯ ಮಾಡಲು ಮುಂದೆ ಗುರುಕರುಣಸ್ಥಲವಾದುದು.

## ಗುರುಕರುಣಸ್ಥಲ

೫೧

ಕಂಡುದ ಹಿಡಿಯಲೊಲ್ಲದೆ ಕಾಣದುದನರಸಿ ಹಿಡಿದಿಹೆನೆಂದಡೆ,
ಸಿಕ್ಕದೆಂಬ ಬಳಲಿಕೆಯ ನೋಡಾ.

ಕಂಡುದನೆ ಕಂಡು ಗುರುಪಾದವಿಡಿದಲ್ಲಿ,
ಕಾಣಬಾರದುದ ಕಾಣಬಹುದು ಗುಹೇಶ್ವರಾ. ॥೧॥

೫೨

ಕೃತಯುಗದಲ್ಲಿ ಶ್ರೀಗುರು ಶಿಷ್ಯಂಗೆ ಬಡಿದು ಬುದ್ಧಿಯ ಕಲಿಸಿದಡೆ
ಆಗಲಿ ಮಹಾಪ್ರಸಾದವೆಂದೆನಯ್ಯಾ
ತ್ರೇತಾಯುಗದಲ್ಲಿ ಶ್ರೀಗುರು ಶಿಷ್ಯಂಗೆ ಬೈದು ಬುದ್ಧಿಯ ಕಲಿಸಿದಡೆ
ಆಗಲಿ ಮಹಾಪ್ರಸಾದವೆಂದೆನಯ್ಯಾ.
ದ್ವಾಪರದಲ್ಲಿ ಶ್ರೀಗುರು ಶಿಷ್ಯಂಗೆ ಝುಂಕಿಸಿ ಬುದ್ಧಿಯ ಕಲಿಸಿದಡೆ
ಆಗಲಿ ಮಹಾಪ್ರಸಾದವೆಂದೆನಯ್ಯಾ.
ಕಲಿಯುಗದಲ್ಲಿ ಶ್ರೀಗುರು ಶಿಷ್ಯಂಗೆ ವಂದಿಸಿ ಬುದ್ಧಿಯ ಕಲಿಸಿದಡೆ
ಆಗಲಿ ಮಹಾಪ್ರಸಾದವೆಂದೆನಯ್ಯಾ
ಗುಹೇಶ್ವರಾ ನಿಮ್ಮ ಕಾಲದ ಕಟ್ಟಳೆಯ ಕಲಿತನಕ್ಕೆ ನಾನು ಬೆರಗಾದೆನು. ॥೨॥

೫೩

ಅಯ್ಯಾ ನೀನೆನಗೆ ಗುರುವಪ್ಪಡೆ, ನಾ ನಿನಗೆ ಶಿಷ್ಯನಪ್ಪಡೆ,
ಎನ್ನ ಕರಣಾದಿ ಗುಣಂಗಳ ಕಳೆದು,
ಎನ್ನ ಕಾಯದ ಕರ್ಮವ ತೊಡೆದು,
ಎನ್ನ ಪ್ರಾಣನ ಧರ್ಮವ ನಿಲಿಸಿ,
ನೀನೆನ್ನ ಕಾಯದಲಡಗಿ, ನೀನೆನ್ನ ಪ್ರಾಣದಲಡಗಿ
ನೀನೆನ್ನ ಭಾವದಲಡಗಿ, ನೀನೆನ್ನ ಕರಸ್ಥಲಕ್ಕೆ ಬಂದು
ಕಾರುಣ್ಯವ ಮಾಡಾ ಗುಹೇಶ್ವರಾ. ॥೩॥

೫೪

ಅಟ್ಟಿತ್ತೊಂದು, ಓಡಿತ್ತೊಂದು, ಮುಟ್ಟಿ ಹಿಡಿಯಿತ್ತೊಂದು,
ಅಟ್ಟಾಟಿಕೆಯಲಿ ಅರಿದಾವುದು ?
ಹಸು ಮಾಣಿಕ್ಯವ ನುಂಗಿ ಬ್ರಹ್ಮೇತಿಗೊಳಗಾಯಿತ್ತು.
ಮೂರ್ತಿಯಾದುದೆ ಅಮೂರ್ತಿಯಾದತ್ತು.
ಅಮೂರ್ತಿಯಾದುದೆ ಮೂರ್ತಿಯಾದತ್ತು.
ಇದನೆಂತು ತೆಗೆಯಬಹುದು ? ಇದನೆಂತು ಕೊಳಬಹುದು ?
ಅಗಮ್ಯ, ಅಗೋಚರ.
ಕಾಯವು ಲಿಂಗದೊಳಡಗಿ, ಪ್ರಾಣವು ಲಿಂಗದೊಳಗಿದ್ದು,

ನೀನೆನ್ನ ಕರಸ್ಥಲದೊಳಗೆ ಮೂರ್ತಿಗೊಂಡು,
ಕಾರುಣ್ಯವ ಮಾಡು ಗುಹೇಶ್ವರಾ. ॥೪॥

೫೫

ಕಾಣದುದನರಸುವರಲ್ಲದೆ ಕಂಡದುದನರಸುವರೆ ಹೇಳಾ ?
ಘನಕ್ಕೆ ಘನವಾದ ವಸ್ತು;
ತಾನೆ ಗುರುವಾದ, ತಾನೆ ಲಿಂಗವಾದ, ತಾನೆ ಜಂಗಮವಾದ.
ತಾನೆ ಪ್ರಸಾದವಾದ, ತಾನೆ ಮಂತ್ರವಾದ, ತಾನೆ ಯಂತ್ರವಾದ
ತಾನೆ ಸಕಲವಿದ್ಯಾರೂಪನಾದ.–
ಇಂತಿವೆಲ್ಲವನೊಳಕೊಂಡು ಎನ್ನ ಕರಸ್ಥಲಕ್ಕೆ ಬಂದ.
ಇನ್ನು ನಿರ್ವಿಕಾರ ಗುಹೇಶ್ವರ. ॥೫॥

೫೬

ಕಸ್ತೂರಿಯ ಮೃಗ ಬಂದು ಸುಳಿಯಿತ್ತಯ್ಯಾ.
ಸಕಲ ವಿಸ್ತಾರದ ರೂಹು ಬಂದು ನಿಂದಿತ್ತಯ್ಯಾ,
ಆವ ಗ್ರಹ ಬಂದು ಸೋಂಕಿತ್ತೆಂದರಿಯೆನಯ್ಯಾ
ಆವ ಗ್ರಹ ಬಂದು ಹಿಡಿಯಿತ್ತೆಂಬುದ ನಾನರಿಯೆನಯ್ಯಾ.
ಹೃದಯಕಮಲಮಧ್ಯದಲ್ಲಿ ಗುರುವನರಿದು ಪೂಜಿಸಿ.
ಗುರು ವಿಖ್ಯಾತನೆಂಬುದ ನಾನರಿದೆನಯ್ಯಾ.
ಗುಹೇಶ್ವರಲಿಂಗದಲ್ಲಿ ಹಿಂದಣ ಹುಟ್ಟರತು ಹೋದುದ ಕಂಡೆನಯ್ಯಾ. ॥೬॥

೫೭

ಎಣ್ಣೆ ಬತ್ತಿ ಪ್ರಣತೆ ಕೂಡಿ ಜ್ಯೋತಿಯ ಬೆಳಗಯ್ಯಾ.
ಅಸ್ಥಿ ಮಾಂಸ ದೇಹ ಪ್ರಾಣ ನಿಃಪ್ರಾಣವಾಯಿತ್ತು.
ದೃಷ್ಟಿ ಪರಿದು ಮನಮುಟ್ಟಿದ ಪರಿಯೆಂತೊ ?
ಮುಟ್ಟಿ ಲಿಂಗವ ಕೊಂಡಡೆ, ಕೆಟ್ಟತ್ತು ಜ್ಯೋತಿಯ ಬೆಳಗು !
ಇದು ಕಷ್ಟವೆಂದರಿದೆನು ಗುಹೇಶ್ವರಾ. ॥೭॥

೫೮

ಪಾತಾಳದಿಂದತ್ತ ಮಾತ ಬಲ್ಲವರಿಲ್ಲ,
ಗಗನದಿಂದ ಮೇಲೆ ಅನುಭಾವ ತಾನಿಲ್ಲ.
ಒಳಗಣ ಜ್ಯೋತಿಯ ಬೆಳಗ ಬಲ್ಲವರಿಲ್ಲ; ಹೊರಗಣ ಹೊರಗನು ಅರಿಯಬಲ್ಲವರಿಲ್ಲ.

ಹಿಂದಣ ಹಿಂದನು, ಮುಂದಣ ಮುಂದನು,
ತಂದು ತೋರಿದ ನಮ್ಮ ಗುಹೇಶ್ವರನು. ॥೮॥

೫೯

ಎತ್ತಣ ಮಾಮರ ಎತ್ತಣ ಕೋಗಿಲೆ, ಎತ್ತಣಿಂದೆತ್ತ ಸಂಬಂಧವಯ್ಯಾ ?
ಬೆಟ್ಟದ ಮೇಲಣ ನೆಲ್ಲಿಯ ಕಾಯಿ ಸಮುದ್ರದೊಳಗಣ ಉಪ್ಪು,
ಎತ್ತಣಿಂದೆತ್ತ ಸಂಬಂಧವಯ್ಯಾ ?
ಗುಹೇಶ್ವರಲಿಂಗಕ್ಕೆಯೂ ನಮಗೆಯೂ ಎತ್ತಣಿಂದೆತ್ತ ಸಂಬಂಧವಯ್ಯಾ. ॥೯॥

೬೦

ಕಾಣಬಾರದ ಲಿಂಗವು ಕರಸ್ಥಲಕ್ಕೆ ಬಂದಡೆ,
ಎನಗಿದು ಸೋಜಿಗ, ಎನಗಿದು ಸೋಜಿಗ !
ಅಹುದೆನಲಮ್ಮೆನು, ಅಲ್ಲೆನಲಮ್ಮೆನು,
ಗುಹೇಶ್ವರಲಿಂಗವು ನಿರಾಳ ನಿರಾಕಾರ ಬಯಲು ಆಕಾರವಾದಡೆ ! ॥೧೦॥

೬೧

ಆದಿಯ ಮುಟ್ಟಬಂದ ಶರಣಂಗೆ ಬದ್ಧ(ಬಂಧ?)ವಿಲ್ಲಯ್ಯಾ.
ಜನ್ಮಕೋಟಿ ಕ್ರೂರಕರ್ಮವ ಮಾಡಿದವಂಗೆ, ಸೋಂಕಿನ ಸೊಬಗ
ಹೇಳಲಿ(ಲೇ?)ಕೆ ?
ಅಂಗದಲ್ಲಿ ಲಿಂಗ ಸೋಂಕಿದ ಶರಣಂಗೆ,
ಕಾಯದೊಳಗುಳ್ಳ ಕರಣಂಗಳು ಕಳಾಕುಳ ಕಳಾಭೇದವಯ್ಯಾ
ಸುಖದ ಸೋಂಕಿನ ಸೊಬಗ, ಇನ್ನಾರಿಗೆಯೂ ಹೇಳಲಿಲ್ಲ ಗುಹೇಶ್ವರ. ॥೧೧॥

೬೨

ಜ್ಯೋತಿಯೊಳಗಣ ಕರ್ಪುರಕ್ಕೆ, ಅಪ್ಪುವಿನ ಕೈಯಲಿಪ್ಪ ಉಪ್ಪಿಂಗೆ,
ಶ್ರೀಗುರುವಿನ ಹಸ್ತದೊಳಗಿಪ್ಪ ಶಿಷ್ಯಂಗೆ–ಈ ಮೂರಕ್ಕೆಯೂ
ಬೇರೆ ಕ್ರಿಯಾವರ್ತನೆಯುಂಟೆ ಗುಹೇಶ್ವರಾ ? ॥೧೨॥

೬೩

ಗುರು, ಶಿಷ್ಯ ಸಂಬಂಧವನರಸಲೆಂದು ಹೋದಡೆ,
ತಾನೆ ಗುರುವಾದ ತಾನೆ ಶಿಷ್ಯನಾದ, ತಾನೆ ಲಿಂಗವಾದ.

ಗುಹೇಶ್ವರಾ–ನಿಮ್ಮ ಶರಣನ ಕಾಯದ ಕೈಯಲ್ಲಿ ಲಿಂಗವ ಕೊಟ್ಟಡೆ,
ಭಾವ ಬತ್ತಲೆಯಾಯಿತ್ತು ! ॥೧೩॥

**ಸೂತ್ರ:** ಇಂತು ಗುರುಕರುಣಸ್ಥಲದಿಂದ ಅವಿರಳ ಲಿಂಗಸಂಬಂಧವ ಹಡದ ಸತ್ಶಿಷ್ಯನು ತನ್ನ ಸಾಂಗಕ್ರಿಯಾವರ್ತನೆಯ ಆಚರಿಸಿ ತೋರುತ್ತಿರಲು ಮುಂದೆ ಭಕ್ತಸ್ಥಲವಾದುದು.



೬೪

ಭವಿಯ ತಂದು ಭಕ್ತನ ಮಾಡಿ, ಪೂರ್ವಾಶ್ರಯವ ಕಳೆದ ಬಳಿಕ,
ಮರಳಿ ಪೂರ್ವಾಶ್ರಯವನೆತ್ತಿ ನುಡಿವ, ಗುರುದ್ರೋಹಿಯ ಮಾತ ಕೇಳಲಾಗದು.
ಹೆಸರಿಲ್ಲದ ಲಿಂಗಕ್ಕೆ ಹೆಸರಿಡುವ ಲಿಂಗದ್ರೋಹಿಯ ಮಾತ ಕೇಳಲಾಗದು.
ಪೂರ್ವದಲ್ಲಿ ನಾಮವಿಲ್ಲದ ಗುರು, ಹೆಸರಿಲ್ಲದ ಲಿಂಗ, ಹೆಸರಿಲ್ಲದ ಶಿಷ್ಯ –
ಈ ತ್ರಿವಿಧಸ್ಥಲವನರಿಯದೆ ಕೆಟ್ಟರು ಗುಹೇಶ್ವರಾ. ॥೧॥

೬೫

ಬೆವಸಾಯವ ಮಾಡಿ ಮನೆಯ ಬೀಯಕ್ಕೆ ಬತ್ತವಿಲ್ಲದಿರ್ದಡೆ,
ಆ ಬೆವಸಾಯದ ಘೋರವೇತಕ್ಕಯ್ಯಾ ?
ಕ್ರಯವಿಕ್ರಯವ ಮಾಡಿ ಮನೆಯ ಸಂಚ ನಡೆಯದನ್ನಕ್ಕ
ಆ ಕ್ರಯವಿಕ್ರಯದ ಘೋರವೇತಕ್ಕಯ್ಯಾ ?
ಒಡೆಯನನೋಲೈಸಿ ತನುವಿಂಗೆ ಅಷ್ಟಭೋಗವ ಪಡೆಯದಿರ್ದಡೆ
ಆ ಓಲಗದ ಘೋರವೇತಕ್ಕಯ್ಯಾ ?
ಭಕ್ತನಾಗಿ ಭವಂ ನಾಸ್ತಿಯಾಗದಿರ್ದಡೆ;
ಆ ಉಪದೇಶವ ಕೊಟ್ಟ ಗುರು, ಕೊಂಡ ಶಿಷ್ಯ,–
ಇವರಿಬ್ಬರ ಮನೆಯಲ್ಲಿ ಮಾರಿ ಹೊಗಲಿ,
ಗುಹೇಶ್ವರನೆಂಬವನತ್ತಲೆ ಹೋಗಲಿ. ॥೨॥

೬೬

ಮೇರುವ ಸಾರಿದ ಕಾಗೆ ಹೊಂಬಣ್ಣವಾಗದಿದ್ದಡೆ,
ಆ ಮೇರುವಿಂದತ್ತಣ ಹುಲುಮೊರಡಿಯೆ ಸಾಲದೆ ?
ದೇವಾ, ನಿಮ್ಮ ಪೂಜಿಸಿ ಧಾವತಿಗೊಂಬಡೆ,
ಆ ಧಾವತಿಯಿಂದ ಮುನ್ನಿನ ವಿಧಿ[ಯೆ] ಸಾಲದೆ ?
ಗುಹೇಶ್ವರಾ, ನಿಮ್ಮ ಪೂಜಿಸಿ ಸಾವಡೆ,
ನಿಮ್ಮಿಂದ ಹೊರಗಣ ಜನವೆ ಸಾಲದೆ ? ॥೩॥

೬೭

ಕಾಳರಕ್ಕಸಿಗೊಬ್ಬ ಮಗ ಹುಟ್ಟಿ,
ಕಾಯದ ರಾಶಿಯ ಮೊಗೆವುತ್ತ ಸುರಿವುತ್ತಲಿದ್ದನಯ್ಯಾ !

ಕಾಳರಕ್ಕಸಿಯ ಮೂಗು ಮೊಲೆಯ ಕೊಯ್ದು,
ದೇವಕನ್ನಿಕೆಯ ಮೊರೆಹೊಕ್ಕು,
ಬಾಯ ತುತ್ತೆಲ್ಲವನು ಉಣಲೊಲ್ಲದೆ ಕಾರಿದಡೆ,
ಆತನೆ ಭಕ್ತನೆಂದೆಂಬೆ ಗುಹೇಶ್ವರಾ. ॥೪॥

೬೮

ರಾಜಸಭೆ ದೇವಸಭೆಯೊಳಗೆ, ದೇವ–ರಾಜ–ಪೂಜಕರೆಲ್ಲಾ ಮುಖ್ಯರಿಗೆ,
ಗುರುವಿನ ಕರುಣ !
ಇದ ಬಲ್ಲರೆ ಅಯ್ಯಾ ಪೂಜಕರೆಲ್ಲರು ?
ಇಂತಹ ಪರಿಗಳ ಕಂಡು ಬೆರಗಾದೆ,
ಗುಹೇಶ್ವರಾ–ಇವರೆಲ್ಲ ಸಂಸಾರವ್ಯಾಪಕರು. ॥೫॥

೬೯

ಅಕ್ಷರವ ಬಲ್ಲೆನೆಂ(ವೆಂ?)ದು ಅಹಂಕಾರವೆಡೆಗೊಂಡು, ಲೆಕ್ಕಗೊಳ್ಳರಯ್ಯಾ.
ಗುರು ಹಿರಿಯರು ತೋರಿದ ಉಪದೇಶದಿಂದ;
ವಾಗದ್ವೈತವನೆ ಕಲಿತು ವಾದಿಪರಲ್ಲದೆ
ಆಗು–ಹೋಗೆಂಬುದನರಿಯರು.
ಭಕ್ತಿಯನರಿಯರು ಯುಕ್ತಿಯನರಿಯರು, [ಮುಕ್ತಿಯನರಿಯರು].
ಮತ್ತೂ ವಾದಕೆಳಸುವರು.
ಹೋದರು ಗುಹೇಶ್ವರಾ ಸಲೆ ಕೊಂಡಮಾರಿಗೆ. ॥೬॥

೭೦

ಐದು ಮುಖದ ಅಂಗನೆಗೆ ಪದಿನೈದು ದೇಹ ನೋಡಾ!
ಆ ಅಂಗನೆಯ ಮನೆಯೊಳಗಿರ್ದು, ತಾವಾರೆಂಬುದನರಿಯದೆ;
ಬಾಯ್ಗೆ ಬಂದಂತೆ ನುಡಿವರು,
ಗುಹೇಶ್ವರಾ ನಿಮ್ಮನರಿಯದ ಜಡರುಗಳು. ॥೭॥

೭೧

ಎಣ್ಣೆ ಬೇರೆ ಬತ್ತಿ ಬೇರೆ: ಎರಡೂ ಕೂಡಿ ಸೊಡರಾಯಿತ್ತು.
ಪುಣ್ಯ ಬೇರೆ ಪಾಪ ಬೇರೆ: ಎರಡೂ ಕೂಡಿ ಒಡಲಾಯಿತ್ತು.
ಮಿಗಬಾರದು, ಮಿಗದಿರಬಾರದು. ಒಡಲಿಚ್ಛೆಯ ಸಲಿಸದೆ ನಿಮಿಷವಿರಬಾರದು.

ಕಾಯಗುಣವಳಿದು ಮಾಯಾಜ್ಯೋತಿ ವಾಯುವ ಕೂಡುವ ಮುನ್ನ,
ಭಕ್ತಿಯ ಮಾಡಬಲ್ಲಡೆ ಆತನೆ ದೇವ ಗುಹೇಶ್ವರಾ. ॥೮॥

೭೨

ಹೊನ್ನು ಮಾಯೆ ಎಂಬರು, ಹೊನ್ನು ಮಾಯೆಯಲ್ಲ.
ಹೆಣ್ಣು ಮಾಯೆ ಎಂಬರು, ಹೆಣ್ಣು ಮಾಯೆಯಲ್ಲ.
ಮಣ್ಣು ಮಾಯೆ ಎಂಬರು, ಮಣ್ಣು ಮಾಯೆಯಲ್ಲ.
ಮನದ ಮುಂದಣ ಆಸೆಯೆ ಮಾಯೆ ಕಾಣಾ ಗುಹೇಶ್ವರ. ॥೯॥

೭೩

ಕಳ್ಳಗಂಜಿ ಕಾಡ ಹೊಕ್ಕಡೆ ಹುಲಿ ತಿಂಬುದ ಮಾಬುದೆ ?
ಹುಲಿಗಂಜಿ ಹುತ್ತವ ಹೊಕ್ಕಡೆ ಸರ್ಪ ತಿಂಬುದ ಮಾಬುದೆ ?
ಕಾಲಗಂಜಿ ಭಕ್ತನಾದಡೆ ಕರ್ಮ ತಿಂಬುದ ಮಾಬುದೆ ? –
ಇಂತೀ ಮೃತ್ಯುವಿನ ಬಾಯ ತುತ್ತಾದ,
ವೇಷಡಂಬಕರ ನಾನೇನೆಂಬೆ ಗುಹೇಶ್ವರಾ. ॥೧೦॥

೭೪

ಐದು ಸರ್ಪಂಗಳಿಗೆ ತನು ಒಂದು, ದಂತವೆರಡು.
ಸರ್ಪ ಕಡಿದು ಸತ್ತ ಹೆಣನು ಸುಳಿದಾಡುವುದ ಕಂಡೆ.
ಈ ನಿತ್ಯವನರಿಯದ ಠಾವಿನಲ್ಲಿ, ಭಕ್ತಿಯೆಲ್ಲಿಯದೊ ಗುಹೇಶ್ವರಾ ? ॥೧೧॥

೭೫

ಹುಟ್ಟಿದಲ್ಲಿಯೆ ಹೊಂದುವುದೆಲ್ಲರಿಗೆಯೂ ಸ್ವಭಾವ.
ಪುಣ್ಯಪಾಪವೆಲ್ಲರಿಗೆಯೂ ಸ್ವಭಾವ.
ಮಹಾಶಿವತತ್ವದಲ್ಲಿ ಹುಟ್ಟಿದ ಶಿವಭಕ್ತರು,
ಆಗಮತತ್ವದಲ್ಲಿ ಹೊಂದಿದಡೇನು ?
ಆ ಪುಣ್ಯಪಾಪವಿಲ್ಲಾಗಿ, ಅವರು ಮಹಾನುಭಾವರು.
ಆದಡೇನು? ಲೋಕದ ಪರಿಯೆ ? – ಅಲ್ಲ.
ಇದ, ಲೋಕದ ಪರಿಯೆಂಬ ಅಜ್ಞಾನಿಗಳನೇನೆಂಬೆ ಗುಹೇಶ್ವರಾ. ॥೧೨॥

೭೬

ಆರೂ ಇಲ್ಲದ ಅರಣ್ಯದೊಳಗೆ ಮನೆಯ ಕಟ್ಟಿದರೆ,
ಕಾಡುಗಿಚ್ಚು ಎದ್ದುಬಂದು ಹತ್ತಿತ್ತಲ್ಲಾ !
ಆ ಉರಿಯೊಳಗೆ ಮನೆ ಬೇವಲ್ಲಿ, ಮನೆಯೊಡೆಯನೆತ್ತ ಹೋದನೊ?
ಆ ಉರಿಯೊಳಗೆ ಬೆಂದ ಮನೆ, ಚೇಗೆಯಾಗುದದ ಕಂಡು,
ಮನೆಯೊಡೆಯನಳಲುತ್ತ ಬಳಲುತ್ತೈದಾನೆ.
ಗುಹೇಶ್ವರಾ, ನಿಮ್ಮ ಒಲವಿಲ್ಲದ ಠಾವ ಕಂಡು,
ಮನದಲ್ಲಿ ಹೇಸಿ ತೊಲಗಿದೆನಯ್ಯಾ. ॥೧೩॥

೭೭

"ಅಣೋರಣೀಯಾನ್ ಮಹತೋ ಮಹೀಯಾನ್" ಎಂಬ ಶ್ರುತಿ ಹುಸಿ.
ಲಿಂಗವಿದ್ದ ಠಾವಿಂಗೆ(ಠಾವಿನಲ್ಲಿ?) ಪ್ರಳಯವುಂಟೆ?
ಭಕ್ತರ ಭಾವದಲ್ಲಿರ್ಪನಲ್ಲದೆ, ಮತ್ತೆಲ್ಲಿಯೂ ಇಲ್ಲ ಗುಹೇಶ್ವರನು. ॥೧೪॥

೭೮

ಪ್ರಣತೆಯೂ ಇದೆ ಬತ್ತಿಯೂ ಇದೆ;
ಜ್ಯೋತಿಯ ಬೆಳಗುವಡೆ,
ತೈಲವಿಲ್ಲದೆ ಪ್ರಭೆ ತಾನೆಲ್ಲಿಯದೊ?
ಗುರುವಿದೆ ಲಿಂಗವಿದೆ; ಶಿಷ್ಯನ ಸುಜ್ಞಾನ ಅಂಕುರಿಸದನ್ನಕ್ಕರ
ಭಕ್ತಿ ಎಲ್ಲಿಯದೊ?
'ಸೋಽಹಂ' ಎಂಬುದಕ್ಕೆ ದಾಸೋಹವ ಮಾಡದಿರ್ದಡೆ
ಅತಿಗಳೆವೆ ನೋಡಾ ಗುಹೇಶ್ವರಾ. ॥೧೫॥

೭೯

ಘನತರವಾದ ಚಿತ್ರದ ರೂಪ ಬರೆಯಬಹುದಲ್ಲದೆ,
ಪ್ರಾಣವ ಬರೆಯಬಹುದೆ ಅಯ್ಯಾ?
ದಿವ್ಯಾಗಮಂಗಳು ಹೇಳಿದ ಕ್ರೀಯಲ್ಲಿ ದೀಕ್ಷೆಯ ಮಾಡಬಹುದಲ್ಲದೆ,
ಭಕ್ತಿಯ ಮಾಡಬಹುದೆ ಅಯ್ಯಾ?
ಪ್ರಾಣವಹ ಭಕ್ತಿಯ ತನ್ಮಯ ನೀನು.
ಈ ಗುಣವುಳ್ಳಲ್ಲಿ ನೀನಿಹೆ, ಇಲ್ಲದಲ್ಲಿ ನೀನಿಲ್ಲ ಗುಹೇಶ್ವರಾ. ॥೧೬॥

೮೦

ಗಂಡಂಗಿಂದ ಹೆಂಡತಿ ಮುನ್ನವೆ ಹುಟ್ಟಿ,
ಗಂಡಂಗಿಂದ ಕಿರಿಯಳಾದಳು
ಆ ಹೆಂಡತಿಯೆ ಒಡಹುಟ್ಟಿದಳಾದಳೆಂಬುದ ಕೇಳಿ,
ಆ ಗಂಡ ಸಂಗವ ಮಾಡಿದಡೆ
ಇಬ್ಬರಿಗೊಂದು ಮಗು ಹುಟ್ಟಿತ್ತಲ್ಲಾ!
ಆ ಹುಟ್ಟಿದ ಮಗುವ ತಾಯಿ ಮುದ್ದಾಡಿಸಿದಡೆ
ತಾಯ ತಕ್ಕೈಸಿತ್ತಿದೇನು ಹೇಳಾ?
ತಾಯಿಯೆದ್ದು ಪತಿಭಕ್ತಿಯ ಮಾಡಿತ್ತ ಕಂಡು
ಗುಹೇಶ್ವರಲಿಂಗಕ್ಕೆ ಭಕ್ತಿ ಪರಿಣಾಮವಾಯಿತ್ತು. ॥೧೭॥

೮೧

ಮುನ್ನಿನ ಪರಿಯಂತುಟಲ್ಲ.
ಆದಡೆಂತಹುದು? ಆಗದಡೆಂತಾಯಿತ್ತು ? (ಆದಡಿಂತಹುದೆ ? ಆಗದಡಿಂತಾಯಿತ್ತು)
ಹಲವು ಪರಿ ಬಗೆಯ ಬಯಕೆ ತಾರ್ಕಣೆಯಾದಂತೆ
ಗುಹೇಶ್ವರಲಿಂಗ, ತನುವ ತನ್ನತ್ತಲೊಯ್ದನು. ॥೧೮॥

೮೨

ಕಾಯಕ್ಕೆ ಮಜ್ಜನ ಪ್ರಾಣಕ್ಕೆ ಓಗರ–
ಇದ ಮಾಡಲಿ ಬೇಕು.
ಸುಳಿವ ಸುಳುಹುಳ್ಳನ್ನಕ್ಕ ಇದ ಮಾಡಲಿ ಬೇಕು.
ಗುಹೇಶ್ವರನೆಂಬ [ಲಿಂಗಕ್ಕೆ] ಆತ್ಮವುಳ್ಳನ್ನಕ್ಕ
ಭಕ್ತಿಯ ಮಾಡಲಿ ಬೇಕು. ॥೧೯॥

೮೩

ಬಂದ ಬಟ್ಟೆಯ ನಿಂದು ನೋಡದೆ, ಬಂದ ಬಟ್ಟೆಯ ಕಂಡು ಸುಖಿಯಾದೆ.
ನಿಂದ ನಿಲುವ ಮುಂದುಗೆಡಿಸಿ, ನಿಂದನಿಲವ ಮುಂದುಗೊಂಡಿತ್ತು.
ತಂದೆ ಮಕ್ಕಳ ಗುಣ ಒಂದು ಭಾವದೊಳಡಗಿ,
ಸಂದಿಲ್ಲದ ಕಾಲೊಳಗೆ ಕೈ ಮೂಡಿತ್ತು.
ಒಂದೊಂದನೆ (ಒಂದನೆ ?) ಹಿಡಿದು ಒಂದೊಂದನೆ (ಒಂದನೆ ?) ಬಿಟ್ಟಡೆ–
ಇದು ನಮ್ಮ ಗುಹೇಶ್ವರನ ಸದ್ಭಕ್ತಿಯಾಯಿತ್ತೈ ಸಂಗನಬಸವಣ್ಣಾ. ॥೨೦॥

೮೪

ತಂದೆಯ ಸದಾಚಾರ ಮಕ್ಕಳೆಂಬರು.
ಗುರುಮಾರ್ಗಾಚಾರ ಶಿಷ್ಯನದೆಂಬರು.
ಮೇಲು ಪಂಕ್ತಿಯ ಕಾಣರು ನೋಡಾ.
ತತ್ವದ ಮೇಲು ಪಂಕ್ತಿ ಅತ್ತಲೆ ಉಳಿಯಿತ್ತು.
ಕತ್ತಲೆಯ ಮರೆಯಲ್ಲಿ ಕಾಣರು ನೋಡಾ.
ತತ್ವದ ಹಾದಿಯನು, ಭಕ್ತಿಯ ಭೇದವನು,
ಇವರೆತ್ತ ಬಲ್ಲರಯ್ಯಾ ಗುಹೇಶ್ವರಾ. ॥೨೧॥

೮೫

ಅದ್ವೈತವ ನುಡಿದು ಅಹಂಕಾರಿಯಾದೆನಯ್ಯಾ.
ಬ್ರಹ್ಮವ ನುಡಿದು ಭ್ರಮಿತನಾದೆನಯ್ಯಾ.
ಶೂನ್ಯವ ನುಡಿದು ನಾನು ಸುಖದುಃಖಕ್ಕೆ ಗುರಿಯಾದೆನಯ್ಯಾ.
ಗುಹೇಶ್ವರಾ ನಿಮ್ಮ ಶರಣ ಸಂಗನಬಸವಣ್ಣನ ಸಾನ್ನಿಧ್ಯದಿಂದ
ನಾನು ಸದ್ಭಕ್ತನಾದೆನಯ್ಯಾ. ॥೨೨॥

೮೬

ಹಳೆಗಾಲದಲಿ ಒಬ್ಬ ಪುರುಷಂಗೆ. ಎಳೆಯ ಕನ್ನಿಕೆಯ ಮದುವೆಯ ಮಾಡಲು.
ಕೆಳದಿಯರೈವರು ನಿಬ್ಬಣ ಬಂದರು.
ಹಸೆಯ ಮೇಲೆ ಮದವಣಿಗನ ತಂದು ನಿಲಿಸಲೊಡನೆ,
ಶಶಿವದನೆ ಬಂದು ಕೈಯ ಪಿಡಿದಳು.
ಮೇಲುದಾಯದಲೊಬ್ಬ ಸತಿ ಕಣ್ಣು ಸನ್ನೆಯ ಮಾಡುತ್ತಿರೆ.
ಕೂಡೆ ಬಂದ ನಿಬ್ಬಣಗಿತ್ತಿಯರೆಲ್ಲ ಹೆಂಡತಿಯರಾದರು !
ದೂರವಿಲ್ಲದ ಗಮನಕ್ಕೆ ದಾರಿಯ ಪಯಣ ಹಲವಾಯಿತ್ತು.
ಸಾರಾಯ ನಿರ್ಣಯವನೇನೆಂಬೆ ಗುಹೇಶ್ವರಾ. ॥೨೩॥

೮೭

ದೇವ ಕಂಡಾ. ಭಕ್ತ ಕಂಡಾ: ಮರಳಿ ಮರಳಿ ಶರಣೆಂಬ ಕಂಡಾ.
ಹೋಯಿತ್ತಲ್ಲಾ ಭಕ್ತ ಜಲವ ಕೂಡಿ !
ಸಾವನ್ನಕ್ಕ ಸರಸವುಂಟೆ ಗುಹೇಶ್ವರಾ ? ॥೨೪॥

೮೮

ಮುಂದು ಜಾವದಲೆದ್ದು, ಲಿಂಗದಂಘ್ರಿಯ ಮುಟ್ಟಿ,
ಸುಪ್ರಭಾತ ಸಮಯದಲ್ಲಿ ಶಿವಭಕ್ತರ ಮುಖವ ನೋಡುವುದು.
ಹುಟ್ಟಿದುದಕ್ಕೆ ಇದೇ ಸಫಲ ನೋಡಾ,
ಸತ್ಯವಚನವಿಂತೆಂದುದು – ಇವಿಲ್ಲದವರ ನಾನೊಲ್ಲೆ ಕಾಣಾ ಗುಹೇಶ್ವರಾ. ॥೨೫॥

೮೯

ಉಲುಹಿನ ವೃಕ್ಷದ ನೆಳಲಡಿಯಲಿರ್ದು,
ಗಲಭೆಯನೊಲ್ಲೆನೆಂಬುದೆಂತಯ್ಯಾ?
ಪಟ್ಟದರಾಣಿಯ ಮುಖವ ಮುದ್ರಿಸಿ, ಮೆಟ್ಟಿ ನಡೆವ ಸತಿಯ ಶಿರವ,
ಮೆಟ್ಟಿ ನಿಲುವ ಪರಿಯೆಂತಯ್ಯಾ?
ಆದಿಯ ಹೆಂಡತಿಯನುಲ್ಲಂಘಿಸಿದ ಕಾರಣ,
ಮೇದಿನಿಯ ಮೇಲೆ ನಿಲಬಾರದು.
ಸಾಧಕರೆಲ್ಲರು ಮರುಳಾದುದ ಕಂಡು
ನಾಚಿ ನಗುತ್ತಿರ್ದೆನು ಗುಹೇಶ್ವರಾ. ॥೨೬॥

೯೦

ಆಚಾರವರಿಯದೆ, ವಿಭವವಳಿಯದೆ,
ಕೋಪವಡಗದೆ ತಾಪ ಮುರಿಯದೆ,
ಬರಿದೆ ಭಕ್ತರಾದೆವೆಂದು ಬೆಬ್ಬನೆ ಬೆರೆಯುವ ಕೇಡಿಂಗೆ
ನಾನು ಮರುಗುವೆ ಕಾಣಾ ಗುಹೇಶ್ವರಾ. ॥೨೭॥

೯೧

ಆಸೆಗೆ ಸತ್ತುದು ಕೋಟಿ, ಆಮಿಷಕ್ಕೆ ಸತ್ತುದು ಕೋಟಿ,
ಹೊನ್ನು ಹೆಣ್ಣು ಮಣ್ಣಿಂಗೆ ಸತ್ತುದು ಕೋಟಿ.
ಗುಹೇಶ್ವರಾ ನಿಮಗಾಗಿ ಸತ್ತವರನಾರನೂ ಕಾಣೆ. ॥೨೮॥

೯೨

ಆದಿಯಲ್ಲಿ ಬಸವಣ್ಣನುತ್ಪತ್ಯವಾದ ಕಾರಣ
ನಾಗಲೋಕದ ನಾಗಗಣಂಗಳಿಗೆಯೂ ಬಸವಣ್ಣನ ಪ್ರಸಾದ.
ಮರ್ತ್ಯಲೋಕದ ಮಹಾಗಣಂಗಳಿಗೆಯೂ ಬಸವಣ್ಣನ ಪ್ರಸಾದ.
ದೇವಲೋಕದ ದೇವಗಣಂಗಳಿಗೆಯೂ ಬಸವಣ್ಣನ ಪ್ರಸಾದ.

ಗುಹೇಶ್ವರಾ ನಿಮ್ಮಾಣೆ,
ಎನಗೆಯೂ ನಿನಗೆಯೂ ಬಸವಣ್ಣನ ಪ್ರಸಾದ. ॥೨೯॥

೯೩

ಕಬ್ಬುನದ ಗುಂಡಿಗೆಯಲ್ಲಿ [ರಸದ] ಭಂಡವ ತುಂಬಿ,
ಹೊನ್ನ ಮಾಡ ಬಲ್ಲಡೆ ಅದು ಪರುಷ ಕಾಣಿರಣ್ಣಾ.
ಲಿಂಗ ಬಂದು ಉಂಬಡೆ ಪ್ರಸಾದಕಾಯವಪ್ಪಡೆ,
ಅಂದಂದಿಂಗೆ ಭವಕರ್ಮ ಮುಟ್ಟಲಮ್ಮದು ಕಾಣಿರೆ.
ಆದಿಯ ಪ್ರಸಾದಕ್ಕೆ ಬಾಧೆಯಿಲ್ಲ ಕಾಣಿರೆ.
ಶಶಿಯಲ್ಲಿ ಕರಗದು ಬಿಸಿಲಲ್ಲಿ ಕೊರಗದು,
ರಸವುಂಡ ಹೊನ್ನು –ಗುಹೇಶ್ವರಾ ನಿಮ್ಮ ಶರಣ ! ॥೩೦॥

೯೪

ನಚ್ಚುಮಚ್ಚಿನ ಲಿಂಗವ ಗ್ರಹಿಸಿ, ಮಚ್ಚು ಒಳಗೊಂಡಿತ್ತಯ್ಯಾ.
ಕರ್ಪುರದ ಕರಡಿಗೆಯ ಘಾಸಿಮಾಡಿದಂತಾಯಿತ್ತು.
ಲಿಂಗಾನುಭಾವಿಗಳ ಸಂಗದಿಂದ ನಾನು ಕಣ್ದೆರೆದೆನು ಕಾಣಾ ಗುಹೇಶ್ವರಾ. ॥೩೧॥

೯೫

ಹೃದಯಕಮಲದೊಳಗೊಂದು ಮರಿದುಂಬಿ ಹುಟ್ಟಿತ್ತು,
ಹಾರಿಹೋಗಿ ಆಕಾಶವ ನುಂಗಿತ್ತಯ್ಯಾ !
ಆ ತುಂಬಿಯ ಗರಿಯ ಗಾಳಿಯಲ್ಲಿ,
ಮೂರು ಲೋಕವೆಲ್ಲವೂ ತಲೆಕೆಳಗಾಯಿತ್ತು !
ಪಂಚ ವರ್ಣದ ಹಂಸೆಯ ಪಂಜರವ ಖಂಡಿಸಿದಡೆ,
ಗರಿ ಮುರಿದು, ತುಂಬಿ ನೆಲಕ್ಕುರುಳಿತ್ತು!
ನಿಜದುದಯದ ಬೆಡಗಿನ ಕೀಲ ,
ಗುಹೇಶ್ವರಾ, ನಿಮ್ಮ ಶರಣರ ಅನುಭವಸಂಗದಲ್ಲಿರ್ದು ಕಂಡೆನಯ್ಯಾ. ॥೩೨॥

೯೬

ಲಿಂಗವನೂ ಪ್ರಾಣವನೂ ಒಂದು ಮಾಡಿ ತೋರಿದ
ಗುರುವಿದ್ದಾನಲ್ಲಾ ಲಿಂಗವಿದ್ದಾನಲ್ಲಾ,
ಇದಕ್ಕೆ ಸಾಕ್ಷಿ ಮುಂದೆ ಜಂಗಮವಿದ್ದಾನಲ್ಲಾ –
ಈ ತ್ರಿವಿಧ ದೃಷ್ಟವ ಕಂಡು, ಬೇರೆಂಬ ಅಜ್ಞಾನಕ್ಕೆ
ನಾನು ಬೆರಗಾದೆನು ಗುಹೇಶ್ವರಾ. ॥೩೩॥

೯೭

ಕಬ್ಬಿನ ಬಿಲ್ಲ ಮಾಡಿ, ಪರಿಮಳದಲದ್ದಿ ಅಂಬ ಮಾಡಿ ನಿಲ್ಲೊ ಬಿಲ್ಲಾಳೆ
ಎನ್ನ ಮನದಲ್ಲಿ ಎಸೆಯ ಬಲ್ಲೆಯಯ್ಯಾ, ಗುಹೇಶ್ವರನೆಂಬ ಲಿಂಗವನು ! ॥೩೪॥

೯೮

ಕಂಗಳೇಕೆ 'ನೋಡಬೇಡಾ' ಎಂದರೆ ಮಾಣವು ?
ಶ್ರೋತ್ರಂಗಳೇಕೆ 'ಆಲಿಸಬೇಡಾ' ಎಂದರೆ ಮಾಣವು ?
ಜಿಹ್ವೆ ಏಕೆ 'ರುಚಿಸಬೇಡಾ' ಎಂದರೆ ಮಾಣವು (ದು ?)
ನಾಸಿಕವೇಕೆ 'ವಾಸಿಸಬೇಡಾ' ಎಂದರೆ ಮಾಣವು ? (ದು ?)
ತ್ವಕ್ಕು ಏಕೆ 'ಸೋಂಕಬೇಡಾ' ಎಂದರೆ ಮಾಣವು ? (ದು ?)—
ಈ ಭೇದವನರಿದು ನುಡಿಯಲು ಸಮಧಾತುವಾಯಿತ್ತು!
ಗುಹೇಶ್ವರಲಿಂಗಕ್ಕೆ ಒಲಿದ ಕಾರಣ, ಅಭಿಮಾನ ಲಜ್ಜೆ ಬೇಸತ್ತು ಹೋಯಿತ್ತು. ॥೩೫॥

೯೯

ಬಿಸುಜಂತೆ ಜವಳಿಗಂಭ !
ಲೇಸಾಯಿತ್ತು ಮನೆ, ಲೇಸಾಯಿತ್ತು ಮೇಲುವೊದಕೆ.
ಮಗುಳೆ ಆ ಲಿಂಗಕ್ಕೆ ಕಿಚ್ಚನಿಕ್ಕಿ ಸುಟ್ಟು,
ಮನೆಯನಿಂಬು ಮಾಡಿದ ಲಿಂಗಜಂಗಮಕ್ಕೆ.
ಹುಟ್ಟುಗೆಟ್ಟು ಬಟ್ಟಬಯಲಲ್ಲಿ ನಾನಿದೇನೆ ಗುಹೇಶ್ವರಾ. ॥೩೬॥

೧೦೦

ತನು ತರತರಂಬೋಗಿ, ಮನವು ನಿಮ್ಮಲ್ಲಿ ಸಿಲುಕಿತ್ತಯ್ಯಾ.
ನೋಟವೇ ಪ್ರಾಣವಾಗಿ ಅಪ್ಯಾಯನ ನಿಮ್ಮಲ್ಲಿ ಆರತುದಯ್ಯಾ.
ಸಿಲುಕಿತ್ತು ಶೂನ್ಯದೊಳಗೆ, ಗುಹೇಶ್ವರಾ ನಿರಾಳವಯ್ಯಾ ! ॥೩೭॥

೧೦೧

ಮನ ಬಸಿರಾದಡೆ ಕೈ ಬೆಸಲಾಯಿತ್ತ ಕಂಡೆ !
ಕರ್ಪೂರದ ಕಂಪ ಕಿವಿ ಕುಡಿಯಿತ್ತ ಕಂಡೆ !
ಮುತ್ತಿನ ಥಾಳವ ಮೂಗು ನುಂಗಿತ್ತ ಕಂಡೆ !
ಕಂಗಳು ಹಸಿದು ವಜ್ರವ ನುಂಗಿತ್ತ ಕಂಡೆ !
ಒಂದು ನೀಲದೊಳಗೆ ಮೂರುಲೋಕವಡಗಿತ್ತ ಕಂಡೆ, ಗುಹೇಶ್ವರಾ. ॥೩೮॥

೧೦೨

ಕಾಲ ಸಡಗರ ಕೈಯಲದೆ ಕೈಯ ಸಡಗರ ಕಂಗಳಲದೆ.
ಅದೇನು ಕಾರಣವೆಂದಡೆ, ಕಂಗಳೇ ಕಾರಣವಾಗಿ,
ಒಂದು ಮಾತಿನೊಳಗೆ ವಿಚಾರವದೆ; ಕನ್ನಡಿಯೊಳಗೆ ಕಾರ್ಯವದೆ,–
ಇದೇನು ಕಾರಣ ತಿಳಿಯಲರಿಯರು ಹೇಳಾ ಗುಹೇಶ್ವರಾ ? ॥೩೯॥

೧೦೩

ಅಮೃತಸಾಗರದೊಳಗಿರ್ದು ಆಕಳ ಚಿಂತೆ ಏಕೆ ?
ಮೇರುಮಧ್ಯದೊಳಗಿರ್ದು ಜರಗ ತೊಳೆವ ಚಿಂತೆ ಏಕೆ ?
ಗುರುವಿನೊಳಗಿರ್ದು ತತ್ವವಿದ್ಯೆಯ ಚಿಂತೆ ಏಕೆ ?
ಪ್ರಸಾದದೊಳಗಿರ್ದು ಮುಕ್ತಿಯ ಚಿಂತೆ ಏಕೆ ?
ಕರಸ್ಥಲದೊಳಗೆ ಲಿಂಗವಿರ್ದ ಬಳಿಕ,
ಮತ್ತಾವ ಚಿಂತೆ ಏಕೆ ಹೇಳಾ ಗುಹೇಶ್ವರಾ ? ॥೪೦॥

೧೦೪

ಈಶ್ವರ ನುಡಿದ ನುಡಿಯನರಿದೆಹೆವೆಂದು,
ಬೇಸರವೋದರು ಅಣ್ಣಗಳೆಲ್ಲಾ.
ಪ್ರಾಣಲಿಂಗವೆಂಬರಯ್ಯಾ.
ಮನ ಘನವೆಂದರಿಯದೆ ಮರುಳುಗೊಂಡರು.
ಈಶ್ವರನನರಿದಡೆ ತಾ ಶಿವನು.
ಗುಹೇಶ್ವರನೆಂಬುದು ಬೇರಿಲ್ಲ. ॥೪೧॥

೧೦೫

ಕರ್ಮ ನಾಸ್ತಿ ಎಂಬೆ, ಅಸ್ತಿ ನಾಸ್ತಿ (ಅನಾಸ್ತಿ ?) ಎಂಬೆ.
ಜ್ಞಾನ [ದ] ಕೊಬ್ಬಿನಲಿ ಉಲಿವೆ, ಉಲಿದಂತೆ ನಡೆವೆ.
ಸಂಗಡ ಸಹಿತ ಕರಸ್ಥಲಕ್ಕೆ ಬಂದು,
ನೀನು ಬಯಲಾಗೆಯಲ್ಲಾ, ಎನ್ನನೂ ಬಯಲು ಮಾಡೆ–ಗುಹೇಶ್ವರಾ. ॥೪೨॥

೧೦೬

ನಿಚ್ಚಕ್ಕೆ ನಿಚ್ಚ ಒತ್ತೆಯ ಬೇಡಿದಡೆ.
ಅಚ್ಚುಗವಾಯಿತ್ತಯ್ಯಾ ನಮ್ಮ ನಲ್ಲಂಗೆ.
ಕಿಚ್ಚನೆ ಹೊತ್ತುಕೊಂಡು ಅರ್ಚನೆಯನಾಡಲು,

ಅಚ್ಚುಗವಾಯಿತ್ತವ್ವಾ ನಮ್ಮ ನಲ್ಲಂಗೆ.
ಅರ್ಚನೆಯ ಗಳಿಹವ ನಿಳುಹಿದಡೆ,
ಬಳಿಕ ನಿಶ್ಚಿಂತವಾಯಿತ್ತು ಗುಹೇಶ್ವರಾ. ||೪೩||

೧೦೭

ಆಸೆಯೆಂಬ ಕೂಸನೆತ್ತಲು,
ರೋಷವೆಂಬ ತಾಯಿ ಮುಂದೆ ಬಂದಿಪ್ಪಳು ನೋಡಾ—
ಇಂತೀ ಎರಡಿಲ್ಲದ ಕೂಸನೆತ್ತ ಬಲ್ಲಡೆ
ಆತನೇ ಲಿಂಗೈಕ್ಯನು ಗುಹೇಶ್ವರಾ. ||೪೪||

೧೦೮

ತಾಯಿ ಬಂಜೆಯಾದಲ್ಲದೆ ಶಿಶು ಗತವಾಗದು.
ಬೀಜ ನಷ್ಟವಾದಲ್ಲದೆ ಸಸಿ ಗತವಾಗದು.
ನಾಮ ನಷ್ಟವಾದಲ್ಲದೆ ನೇಮ ನಷ್ಟವಾಗದು.
ಮೊದಲು ಕೆಟ್ಟಲ್ಲದೆ ಲಾಭದಾಸೆ ಬಿಡದು.
ಗುಹೇಶ್ವರನೆಂಬ ಲಿಂಗದ ನಿಜವನೆಯ್ದುವಡೆ,
ಪೂಜೆಯ ಫಲ ಮಾದಲ್ಲದೆ ಭವಂ ನಾಸ್ತಿಯಾಗದು. ||೪೫||

೧೦೯

ಬೆಟ್ಟಕ್ಕೆ ಚಳಿಯಾದೊಡೆ ಏನ ಹೊದಿಸುವರಯ್ಯಾ?
ಬಯಲು ಬತ್ತಲೆ ಇದ್ದಡೆ ಏನ ನುಡಿಸುವರಯ್ಯಾ?
ಭಕ್ತನು ಭವಿಯಾದಡೆ ಆದೇನನುಪಮಿಸುವೆನಯ್ಯಾ ಗುಹೇಶ್ವರಾ ? ||೪೬||

೧೧೦

ಸತ್ತ ಬಳಿಕ ಮುಕ್ತಿಯ ಪಡೆದೆಹೆನೆಂದು ಪೂಜಿಸ ಹೋದಡೆ,
ಆ ದೇವರೇನ ಕೊಡುವರೊ ?
ಸಾಯದೆ ನೋಯದೆ ಸ್ವತಂತ್ರನಾಗಿ, ಸಂದುಭೇದವಿಲ್ಲದಿಪ್ಪ
ಗುಹೇಶ್ವರಾ ನಿಮ್ಮ ಶರಣ. ||೪೭||

೧೧೧

ನೀರ ನೆಳಲನೆ ಕಡಿದು, ಮೇರುವೆಂಬುದ ನುಂಗಿ,
ಶಾರದೆಯೆಂಬವಳ ಬಾಯ ಕಟ್ಟಿ,

ಕಾರ ಮೇಘದ ಬೆಳಸ ನೀರ ಹರಿ ನುಂಗಲು
ದಾರಿ ಮೃತ್ಯುವ ನುಂಗಿ ನಗುತ್ತಿದ್ದಿತು.
ನಾರಿಯ ಬೆನ್ನ ಮೇಲೆ ಗಂಡ ಬಂದು ಕುಳ್ಳಿರಲು,
ನೀರ ಹೊಳೆಯವರೆಲ್ಲರ ಕೊಡನೊಡೆದವು.
ಕಾರೆಯ ಮುಳ್ಳಿರ್ದು ಕಲಿಗಳನಟ್ಟಿ ಸದೆವಾಗ,
ಸೋರುಮುಡಿಯಾಕೆ ಗೊರವನ ನೆರೆದಳು.
ಬಳ್ಳು ಆನೆಯ ನುಂಗಿ, ಹೊಳೆ (ಒಳ್ಳೆ ?) ಸಮುದ್ರವ ಕುಡಿದು,
ಕುಳ್ಳಿರ್ದ ಶಿಶು ಹಲಬರನೆಯ್ದೆ ನುಂಗಿ,
ಅತ್ತೆ ಅಳಿಯನ ಕೂಡಿ ಕೋಡಗವ ಹಡೆದಲ್ಲಿ,
ಹತ್ತಿರಿರ್ದ ಹಾವಾಡಿಗನನು ಅದು ನುಂಗಿತ್ತು!
ಕಪ್ಪೆ ಸರ್ಪನ ಹಿಡಿದು ಒತ್ತಿ ನುಂಗುವಾಗ,
ಕಪ್ಪೆಯ ಕೊರಳಲ್ಲಿ ಬಿಳಿದು ಕೆಂಪಡರಲು,
ನಿಶ್ಚಿಂತವಾಯಿತ್ತು ಗುಹೇಶ್ವರನ ಶರಣಂಗೆ,
ಕಟ್ಟಿದಿರ ಕರ್ಪುರದ ಜ್ಯೋತಿಯಂತೆ! ॥೪೮॥

೧೧೨

ಪೃಥ್ವಿಕುಲಮಂಟಪದ ಮೇಲೆ ಪಾದ(ಪದ?)ಶಿಲೆ ಬಿಗಿದು,
ತಳಕಂಭ ಕಳಸದ ಮೇಲೆ ಕೆಸರುಗಲ್ಲು –
ಒಂದು ಮಠಕ್ಕೆ ಒಂಬತ್ತು ತುಂಬಿಯ ಆಳಾಪ.
ಬಗೆಯ ಬಣ್ಣದ ಮೇಲೆ ಹಿರಿದಪ್ಪ ಸಂಯೋಗ !
ಅಂಗಜನ ಪಡೆ ಕೋಟಿ, ಮುಂಡವೆದ್ದು ಕುಣಿವಲ್ಲಿ,
ರಣವುಂಡ ಭೂಮಿಯನು ಮೀರಿದನು ಗುಹೇಶ್ವರಾ ! ॥೪೯॥

ಸೂತ್ರ: ಇಂತು ಭಕ್ತಸ್ಥಲದಲ್ಲಿ ಸದಾಚಾರ ಸಂಪತ್ತುವಿಡಿದು ಆಚರಿಸಿ ಐಕ್ಯವಾದ ಸದ್ಭಕ್ತನು ಮುಂದೆ ಮಾಹೇಶ್ವರಸ್ಥಲದಲ್ಲಿ ನಿಷ್ಠಾಮುಖದಿಂದಾಚರಿಸಿ ಬೆರಸುವ ಭೇದವೆಂತಿರ್ದುದೆಂದಡೆ ಮುಂದೆ ಮಾಹೇಶ್ವರಸ್ಥಲವಾದುದು.



೧೧೩

ಆಗಮಪುರುಷರಿರಾ,
ನಿಮ್ಮ ಆಗಮ ವಾಯವಾಗಿ ಹೋಯಿತ್ತಲ್ಲಾ.
ವಿದ್ಯಾಪುರುಷರಿರಾ ನಿಮ್ಮ ವಿದ್ಯೆ ಅವಿದ್ಯೆಯಾಗಿ ಹೋದಲ್ಲಿ,
ಬರುಮುಖರಾಗಿ ಇದ್ದಿರಲ್ಲಾ.
ವೇದಪುರುಷರಿರಾ ನಿಮ್ಮ ವೇದ ಹೊಲಬುದಪ್ಪಿ ಹೋದಲ್ಲಿ,
ವೇದವೇ ದೈವವೆಂದು ಕೆಟ್ಟಿರಲ್ಲಾ.
ಪುರಾಣಪುರುಷರಿರಾ ನಿಮ್ಮ ಪುರಾಣ ವಿಚಾರಭ್ರಷ್ಟವಾಗಿ ಹೋದಲ್ಲಿ,
ನೀವು ಒಡನೆ ಭ್ರಷ್ಟರಾಗಿ ಹೋದಿರಲ್ಲಾ.
ಶಾಸ್ತ್ರಪುರುಷರಿರಾ, ನಿಮ್ಮ ಶಾಸ್ತ್ರದ ಮಹಾಪಥ ಹೊನಲಲ್ಲಿ ಹೋದಲ್ಲಿ
ಭಕ್ತದೇಹಿಕದೇವನೆಂದರಿಯದೆ ಕೆಟ್ಟಿರಲ್ಲಾ.
'ಯತ್ರ ಶಿವಸ್ತತ್ರ ಮಾಹೇಶ್ವರ'ನೆಂದು ಹೇಳಿತ್ತು ಮುನ್ನ,
ಅಂತು ಭಕ್ತ, ನಿತ್ಯ ಸತ್ಯ ಸನ್ನಿಹಿತ ಗುಹೇಶ್ವರಾ—ನಿಮ್ಮ ಶರಣ. ॥೧॥

೧೧೪

ಕಲ್ಲ ಹೋರಿಸೊಳಗೊಂದು ಕಿಚ್ಚು ಹುಟ್ಟಿತ್ತ ಕಂಡೆ.
ಹುಲ್ಲ ಮೇವ ಎರಳೆಯ, ಹುಲಿಯ, ಸರಸವ ಕಂಡೆ
ಎಲ್ಲರೂ ಸತ್ತು ಆಡುತ್ತಿಪ್ಪುದ ಕಂಡೆ.
ಇನ್ನು ಎಲ್ಲಿಯ ಭಕುತಿ ಹೇಳಾ ಗುಹೇಶ್ವರಾ ? ॥೨॥

೧೧೫

ಕುರೂಪಿ ಸುರೂಪಿಯ ನೆನೆದಡೆ ಸುರೂಪಿಯಪ್ಪನೆ ?
ಆ ಸುರೂಪಿ ಕುರೂಪಿಯ ನೆನೆದಡೆ ಕುರೂಪಿಯಪ್ಪನೆ ?
ಧನವುಳ್ಳವರ ನೆನೆದಡೆ ದರಿದ್ರ (ದಾರಿದ್ರ್ಯ ?) ಹೋಹುದೆ ?
ಪುರಾತರನು ನೆನೆದು ಕೃತಾರ್ಥರಾದೆವೆಂಬರು,
ತಮ್ಮಲ್ಲಿ ಭಕ್ತಿ ನಿಷ್ಠೆಯಿಲ್ಲದವರ ಕಂಡಡೆ ಮೆಚ್ಚನು ಗುಹೇಶ್ವರನು. ॥೩॥

೧೧೬

ಕಾರಣವಿಲ್ಲ ಕಾರ್ಯವಿಲ್ಲ ಏತಕ್ಕೆ ಭಕ್ತರಾದೆವೆಂಬಿರೊ ?
ಐವರ ಬಾಯ ಎಂಜಲನುಂಬಿರಿ, ಐವರು ಸ್ತ್ರೀಯರ ಮುಖವನರಿಯಿರಿ.

ಮೂರು ಸಂಕಲೆಯ ಕಳೆಯಲರಿಯಿರಿ.
ಕಾಯವಿಡಿದು ಲಿಂಗವ ಮುಟ್ಟಿಹೆನೆಂಬ, ಭ್ರಮೆಯ ನೋಡಾ ಗುಹೇಶ್ವರಾ. ॥೪॥

೧೧೭

ಉದಯವಾಯಿತ್ತ ಕಂಡು ಉದರಕ್ಕೆ ಕುದಿವರಯ್ಯಾ.
ಕತ್ತಲೆಯಾಯಿತ್ತ ಕಂಡು ಮಜ್ಜನಕ್ಕೆರೆವರಯ್ಯಾ.
ಲಿಂಗಕ್ಕೆ ನೇಮವಿಲ್ಲ.
ಇರುಳಿಗೊಂದು ನೇಮ, ಹಗಲಿಗೊಂದು ನೇಮ ?
ಲಿಂಗಕ್ಕೆ ನೇಮವಿಲ್ಲ.
ಕಾಯ ಒಂದು ದೆಸೆ, ಜೀವ ಒಂದು ದೆಸೆ,
ಗುಹೇಶ್ವರನೆಂಬ ಲಿಂಗ ತಾನೊಂದು ದೆಸೆ. ॥೫॥

೧೧೮

ಆಗ್ಘವಣಿ ಪತ್ರೆ ಪುಷ್ಪ ಧೂಪ ದೀಪ ನಿವಾಳಿಯಲ್ಲಿ
ಪೂಜಿಸಿ ಪೂಜಿಸಿ ಬಳಲುತ್ತೈದಾರೆ.
ಏನೆಂದರಿಯರು ಎಂತೆಂದರಿಯರು.
ಜನ ಮರುಳೊ ಜಾತ್ರೆ ಮರುಳೊ ಎಂಬಂತೆ;
ಎಲ್ಲರೂ ಪೂಜಿಸಿ, ಏನನೂ ಕಾಣದೆ,
ಲಯವಾಗಿ ಹೋದರು ಗುಹೇಶ್ವರಾ. ॥೬॥

೧೧೯

ಮಜ್ಜನಕ್ಕೆರೆದು ಫಲವ ಬೇಡುವರಯ್ಯಾ,
ತಮಗೆಲ್ಲಿಯದೊ ಆ ಫಲವು ಸಿತಾಳಕ್ಕಲ್ಲದೆ ?
ಪತ್ರೆ ಪುಷ್ಪದಲ್ಲಿ ಪೂಜಿಸಿ ಫಲವ ಬೇಡುವರಯ್ಯಾ.
ತಮಗೆಲ್ಲಿಯದೊ ಆ ಫಲವು ಗಿಡುಗಳಿಗಲ್ಲದೆ ?
ಸೈದಾನವ(ಸುಯಿಧಾನವ ?)ನರ್ಪಿಸಿ ಫಲವ ಬೇಡುವರಯ್ಯಾ
ತಮಗೆಲ್ಲಿಯದೊ ಆ ಫಲವು ಹದಿನೆಂಟು ಧಾನ್ಯಕ್ಕಲ್ಲದೆ ?
ಲಿಂಗದೊಡವೆಯ ಲಿಂಗಕ್ಕೆ ಕೊಟ್ಟು,
ಫಲವ ಬೇಡುವ ಸರ್ವ ಅನ್ಯಾಯಿಗಳನೇನೆಂಬೆ ಗುಹೇಶ್ವರಾ ! ॥೭॥

೧೨೦

ಹಾಲ ನೇಮವ ಹಿಡಿದಾತ ಬೆಕ್ಕಾಗಿ ಹುಟ್ಟುವ.
ಕಡಲೆಯ ನೇಮವ ಹಿಡಿದಾತ ಕುದುರೆಯಾಗಿ ಹುಟ್ಟುವ.
ಆಗ್ಘವಣಿಯ ನೇಮವ ಹಿಡಿದಾತ ಕಪ್ಪೆಯಾಗಿ ಹುಟ್ಟುವ.
ಪುಷಕಪದ ನೇಮವ ಹಿಡಿದಾತ ತುಂಬಿಯಾಗಿ ಹುಟ್ಟುವ ...
ಇವು ಷಡುಸ್ಥಲಕ್ಕೆ ಹೊರಗು.
ನಿಜಭಕ್ತಿ ಇಲ್ಲದವರ ಕಂಡಡೆ ಮೆಚ್ಚನು ಗುಹೇಶ್ವರನು. ॥೮॥

೧೨೧

ಅಗ್ನಿಸ್ತಂಭದ ರಕ್ಷೆಯಿದ್ದು ಮನೆ ಬೆಂದಿತ್ತಯ್ಯಾ.
ಬಲಮುರಿಯ ಶಂಖವಿದ್ದು ಪದ ಹೋಯಿತ್ತಯ್ಯಾ.
ಏಕಮುಖ ರುದ್ರಾಕ್ಷಿಯಿದ್ದು ವಿಘ್ನವಾಯಿತ್ತಯ್ಯಾ.
ಇವೆಲ್ಲವ ಸಾಧಿಸಿದಡೆ,
ಏನೂ ಇಲ್ಲದಂತಾಯಿತ್ತು ಕಾಣಾ ಗುಹೇಶ್ವರಾ. ॥೯॥

೧೨೨

ಜಾಲಗಾರನ ಕಾಲು ಮುಳ್ಳು ತಾಗಿ ನೊಂದಿತ್ತೆಂಬಂತೆ,
ಸೂನೆಗಾರನ ಮನೆಯಲ್ಲಿ ಹೆಣ ಹೋಗಿ ಅಳುವಂತೆ,
ಕನ್ನಗಳ್ಳನ ಮನೆಯಲ್ಲಿ ಬಟ್ಟಲು ಹೋಗಿ ಮರಗುವಂತೆ.–
ಠಕ್ಕನ ಪೂಜೆಗೆ ಮೆಚ್ಚುವನೆ ನಮ್ಮ ಗುಹೇಶ್ವರನು? ॥೧೦॥

೧೨೩

ಸಾಸವೆಯಷ್ಟು ಸುಖಕ್ಕೆ ಸಾಗರದಷ್ಟು ದುಃಖ ನೋಡಾ.
ಗಳಿಗೆಯ ಬೇಟವ ಮಾಡಿಹೆನೆಂಬ ಪರಿಯ ನೋಡಾ.
ತನ್ನನ್ನಿಕ್ಕಿ ನಿಧಾನವ ಸಾಧಿಸಿಹೆನೆಂದಡೆ,
ಬಿನ್ನಾಣ ತಪ್ಪಿತ್ತು ಗುಹೇಶ್ವರಾ. ॥೧೧॥

೧೨೪

ಜವನ ಕದ್ದ ಕಳ್ಳನು ಆಗಲಿ ಮಿಕ್ಕು ಹೋದಡೆ,
ಆಗಲಿಕ್ಕೆ ಹಬ್ಬಿತ್ತು ಅಲ್ಲಲ್ಲಿ ನೋಡಲು.
ಶರಣರ ಸಂಗವನರಸುವರೆಲ್ಲಾ ಅಲ್ಲಲ್ಲಿ ನೋಡಿರೆ !

ಸಾಧಕರೆಲ್ಲರೂ ಸಾಧಿಸ ಹೋಗಿ,
ಅಭೇದ್ಯವನರಿಯದೆ ಕೆಟ್ಟರು ಗುಹೇಶ್ವರಾ. ॥೧೨॥

೧೨೫

ಭವವುಳ್ಳನ್ನಕ್ಕ ಧಾವತಿ ಮಾಣದು, ಶರೀರವುಳ್ಳನ್ನಕ್ಕ ಅವಸ್ಥೆ ಮಾಣದು.
ಗುಹೇಶ್ವರನೆಂಬ [ನೆನಹು] ಉಳ್ಳನ್ನಕ್ಕ, ಲಿಂಗವೆಂಬುದ ಬಿಡಲಾಗದು. ॥೧೩॥

೧೨೬

ಮಜ್ಜನಕ್ಕೆರೆವರೆಲ್ಲ, ಇದ್ದಲ್ಲಿ ಫಲವೇನು?
ಮುದ್ರಾಧಾರಿಗಳಪ್ಪರಯ್ಯಾ.
ಲಿಂಗದಲ್ಲಿ ನಿಷ್ಠೆಯಿಲ್ಲ, ಜಂಗಮದಲ್ಲಿ ಪ್ರೇಮವಿಲ್ಲ
ವೇಷಧಾರಿಗಳಪ್ಪರಯ್ಯಾ.
ಲಾಂಛನ ನೋಡಿ ಮಾಡುವ ಭಕ್ತಿ, ಸಜ್ಜನಸಾರಾಯವಲ್ಲ,
ಗುಹೇಶ್ವರ ಮೆಚ್ಚನಯ್ಯಾ. ॥೧೪॥

೧೨೭

ಕೊಟ್ಟ ಕುದುರೆಯನೇರಲರಿಯದೆ
ಮತ್ತೊಂದು ಕುದುರೆಯನೇರ ಬಯಸುವರು,
ವೀರರೂ ಅಲ್ಲ, ಧೀರರೂ ಅಲ್ಲ, ಇದು ಕಾರಣ–
ನೆರೆ ಮೂರು ಲೋಕವೆಲ್ಲವೂ ಹಲ್ಲಣವ ಹೊತ್ತುಕೊಂಡು,
ತೊಳಲುತ್ತ ಇದ್ದಾರೆ.
ಗುಹೇಶ್ವರನೆಂಬ ಲಿಂಗವನವರೆತ್ತ ಬಲ್ಲರು ? ॥೧೫॥

೧೨೮

ಜೀವವಿಲ್ಲದ ಹೆಣನ ಹಿಡಿದಾಡುವರಯ್ಯಾ.
ಪ್ರತಿಯಿಲ್ಲದಪ್ರತಿಗೆ ಪ್ರತಿಯ ಮಾಡುವರಯ್ಯಾ.
ಶಿರವಿಲ್ಲದ ಮುಂಡಕ್ಕೆ ಸೇಸೆಯನಿಕ್ಕುವರಯ್ಯಾ – ಗುಹೇಶ್ವರ. ॥೧೬॥

೧೨೯

ಆದ್ಯರಲ್ಲ ವೇದ್ಯರಲ್ಲ ಸಾಧ್ಯರಲ್ಲದ ಹಿರಿಯರ ನೋಡಾ.
ತನುವಿಕಾರ ಮನವಿಕಾರ ಇಂದ್ರಿಯವಿಕಾರದ ಹಿರಿಯರ ನೋಡಾ.

ಶಿವಚಿಂತೆ ಶಿವಜ್ಞಾನಿಗಳ ಕಂಡಡೆ, ಆಳವಾಡಿ ನುಡಿವರು,
ಗುಹೇಶ್ವರನರಿಯದ ಕರ್ಮಿಗಳು. ॥೧೭॥

೧೩೦

ಆಳವರಿಯದ ಭಾಷೆ, ಬಹುಕುಳವಾದ ನುಡಿ–
ಇಂತೆರಡರ ನುಡಿ ಹುಸಿಯಯ್ಯಾ.
ಬಹು ಭಾಷಿತರು; ಸುಭಾಷಿತ ವರ್ಜಿತರು.
'ಶರಣಸತಿ ಲಿಂಗಪತಿ' ಎಂಬರು ಹುಸಿಯಯ್ಯಾ.
ಇಂತಪ್ಪವರ ಕಂಡು ನಾನು ನಾಚಿದೆನಯ್ಯಾ ಗುಹೇಶ್ವರಾ. ॥೧೮॥

೧೩೧

ಅಮರಾವತಿಯ ಪಟ್ಟಣದೊಳಗೆ,
ದೇವೇಂದ್ರನಾಳುವ ನಂದನವನವಯ್ಯಾ.
ಅತ್ತ ಸಾರಲೆ ಕಾಮಯ್ಯಾ, ಮೋಹವೆ ನಿನಗೆ?
ಲೋಕಾದಿಲೋಕವೆಲ್ಲವ ಮರುಳು ಮಾಡಿದೆ.
ಕಾಮಾ, ಗುಹೇಶ್ವರಲಿಂಗವನರಿಯೊ. ॥೧೯॥

೧೩೨

ದೇಶ ಗುರಿಯಾಗಿ ಲಯವಾಗಿ ಹೋದವರ ಕಂಡೆ.
ತಮಂಧ ಗುರಿಯಾಗಿ ಲಯವಾಗಿ ಹೋದವರ ಕಂಡೆ.
ಕಾಮ ಗುರಿಯಾಗಿ ಬೆಂದು ಹೋದವರ ಕಂಡೆ.
ನೀ ಗುರಿಯಾಗಿ ಹೋದವರನಾರನೂ ಕಾಣೆ ಗುಹೇಶ್ವರಾ. ॥೨೦॥

೧೩೩

ಆ ಮಾತು, ಈ ಮಾತು, ಹೋ ಮಾತು–ಎಲ್ಲವೂ ನೆರೆದು ಹೋಯಿತ್ತಲ್ಲಾ
ಭಕ್ತಿ ನೀರಲ್ಲಿ ನೆರೆದು ಜಲವ ಕೂಡಿ ಹೋಯಿತ್ತಲ್ಲಾ.
ಸಾವನ್ನಕ್ಕ [ಸರಸ] ಉಂಟೇ ಗುಹೇಶ್ವರಾ? ॥೨೧॥

೧೩೪

ಅಗ್ನಿಗೆ ತಂಪುಂಟೆ? ವಿಷಕ್ಕೆ ರುಚಿಯುಂಟೆ ಹೇಳಾ ?
ಕಂಗಳಿಗೆ ಮರೆಯುಂಟೆ ಹೇಳಾ ಲಿಂಗವೆ ?
ದಾಳಿಕಾರಂಗೆ ಧರ್ಮವುಂಟೆ ? [ಕನ್ನಗಳ್ಳಂಗೆ] ಕರುಳುಂಟೆ ?

ಗುಹೇಶ್ವರಾ, ನಿಮ್ಮ ಶರಣರು,
ಮೂರು ಲೋಕವರಿಯೆ ನಿಶ್ಚಟರಯ್ಯಾ. ॥೨೨॥

೧೩೫

ಲಿಂಗಭಕ್ತನೆಂದು ಜಗವೆಲ್ಲಾ ಸಾರುತ್ತಿಪ್ಪರು.
ಲಿಂಗಭಕ್ತನ ಇಬ್ಬಾವುದೆಂದರಿಯರು.
ಲಿಂಗಭಕ್ತ ಹಮ್ಮುಬಿಮ್ಮಿನವನೆ ? ಲಿಂಗಭಕ್ತ ಸೀಮೆಯಾದವನೆ ?
ಪ್ರಾಣವಿಲ್ಲದ ರೂಹು, ಒಡಲಿಲ್ಲದ ಜಂಗಮ,
ಉಳಿದುವೆಲ್ಲಾ 'ಸಟೆ' ಎಂಬೆನು ಗುಹೇಶ್ವರಾ. ॥೨೩॥

೧೩೬

ಭಕ್ತ ಭಕ್ತನೆಂಬರು,
ಪೃಥ್ವಿಯ ಪೂರ್ವಾಶ್ರಯವ ಕಳೆಯ[ಲರಿಯ]ದನ್ನಕ್ಕ,
ಅಪ್ಪುವಿನ ಪೂರ್ವಾಶ್ರಯವ ಕಳೆಯಲರಿಯದನ್ನಕ್ಕ,
ತೇಜದ ಪೂರ್ವಾಶ್ರಯವ ಕಳೆಯಲರಿಯದನ್ನಕ್ಕ,
ವಾಯುವಿನ ಪೂರ್ವಾಶ್ರಯವ ಕಳೆಯಲರಿಯದನ್ನಕ್ಕ,
ಆಕಾಶದ ಪೂರ್ವಾಶ್ರಯವ ಕಳೆಯಲರಿಯದನ್ನಕ್ಕ,
ಸೋಮಸೂರ್ಯರ ಕಳೆಗಳ ಪೂರ್ವಾಶ್ರಯವ ಕಳೆಯಲರಿಯದನ್ನಕ್ಕ,
ಆತ್ಮನ ಪೂರ್ವಾಶ್ರಯವ ಕಳೆಯಲರಿಯದನ್ನಕ್ಕ,–
ಭಕ್ತರೆಂದು ಲಿಂಗವ ಪೂಜಿಸುವವರ ಕಂಡು
ನಾನು ಬೆರಗಾದೆ ಗುಹೇಶ್ವರಾ. ॥೨೪॥

೧೩೭

ಅನ್ಯ ರಜವ ಸೋಂಕದೆ, ತನ್ನ ರಜವ ಬಾಧಿಸದೆ,
ರವಿಯ ಬೆಳಸ ಬಳಸದೆ ಲಿಂಗದಲ್ಲಿ ಬೆಳೆದ ಬೆಳಸ ತಂದು,
ಜಂಗಮದಲ್ಲಿ ಸವೆಸುತಿಪ್ಪ[ನು] ಲಿಂಗಭಕ್ತ.
ಆ ಭಕ್ತನಲ್ಲಿ ಗುಹೇಶ್ವರಲಿಂಗವಿಪ್ಪನು. ॥೨೫॥

೧೩೮

ತ್ರಿವಿಧದ ನಿತ್ಯವ, ತ್ರಿವಿಧದ ಅನಿತ್ಯವ ಬಲ್ಲವರಾರೊ?
ತ್ರಿವಿಧಕ್ಕೆ ತ್ರಿವಿಧವನಿತ್ತು ತ್ರಿವಿಧ ಪ್ರಸಾದವ ಕೊಳ್ಳಬಲ್ಲಡೆ;
ಆತನು ತ್ರಿವಿಧನಾಥನೆಂಬೆನು, ಆತನು ವೀರನೆಂಬೆನು.

ಆತನು ಧೀರನೆಂಬೆನು,
ಆತನು ಗುಹೇಶ್ವರಲಿಂಗದಲ್ಲಿ ಅಚ್ಚಪ್ರಸಾದಿಯೆಂಬೆನು. ॥೨೬॥

೧೩೯

ಪ್ರಣವಮಂತ್ರವ ಕರ್ಣದಲ್ಲಿ ಹೇಳಿ,
ಶ್ರೀಗುರು ಶಿಷ್ಯನ ಅಂಗದ ಮೇಲೆ ಲಿಂಗಪ್ರತಿಷ್ಠೆಯ ಮಾಡಿದ ಬಳಿಕ,
ಪ್ರಾಣದಲ್ಲಿ ಲಿಂಗವಿಪ್ಪುದೆಂಬ ವ್ರತಗೇಡಿಗಳ ಮಾತ ಕೇಳಲಾಗದು.
ಒಳಗಿಪ್ಪನೆ ಲಿಂಗದೇವನು ಮಲ ಮೂತ್ರ ಮಾಂಸದ ಹೇಸಿಗೆಯೊಳಗೆ ?
ಅಲ್ಲಿ ಪ್ರಾಣವಿಪ್ಪುದಲ್ಲದೆ ಲಿಂಗವಿಪ್ಪುದೆ ?
ಆ ಪ್ರಾಣವ ತಂದು ತನ್ನ ಇಷ್ಟಲಿಂಗದಲ್ಲಿ ಇರಿಸಿ ನೆರೆಯ ಬಲ್ಲಡೆ,
ಆತನೆ ಪ್ರಾಣಲಿಂಗಸಂಬಂಧಿ.
ಅಲ್ಲದವರ ಮೆಚ್ಚುವನೆ ನಮ್ಮ ಗುಹೇಶ್ವರಲಿಂಗವು. ॥೨೭॥

೧೪೦

ಕಾಯದೊಳಗಣ ಜೀವವ ಮೀರಿ ಹೋಹ ಕಳ್ಳನ ಸಂಗ ಬೇಡ.
ನಿಮ್ಮ ನಿಮ್ಮ ವಸ್ತುವ ಸುಯಿಧಾನವ ಮಾಡಿಕೊಳ್ಳಿ
ಗುಹೇಶ್ವರನೆಂಬ ಕಳ್ಳನ ಕೊಂದಡೆ ಆಳುವವರಾರೂ ಇಲ್ಲ! ॥೨೮॥

೧೪೧

ಅಕ್ಕಟಾ ಜೀವನ ತ್ರಿವಿಧವೆ,
ಮೂರಕ್ಕೆ ಮುಟ್ಟದೆ ಹೋದೆಯಲ್ಲಾ!
ಬಿಂದುವಿನ ಕೊಡನ ಹೊತ್ತುಕೊಂಡು,
ಅಂದಚಂದಗೆಟ್ಟು ಆಡುವರಯ್ಯಾ!
ಗುಹೇಶ್ವರ ನಿರಾಳವೆ, ಐದರಿಂದ ಕೆಟ್ಟಿತ್ತು ಮೂರು ಲೋಕ ! ॥೨೯॥

೧೪೨

ಅಷ್ಟದಳಕಮಲದ ಮೇಲಿಪ್ಪ ನಿಶ್ಶೂನ್ಯನ ಮರ್ಮವನರಿಯದೆ,
ಪ್ರಾಣಲಿಂಗವೆಂದೆಂಬರು, ಸಂತೆಯ ಸುದ್ದಿಯ ವಂಚಕರು.
ಅಂಗದ ಆಪ್ಯಾಯನಕ್ಕೆ ಲಿಂಗವನರಸುವ,
ಭಂಗಿತರನೇನೆಂಬೆ ಗುಹೇಶ್ವರಾ. ॥೩೦॥

೧೪೩

ಲಿಂಗಾರ್ಚನೆಯಿಲ್ಲದ ಮುನ್ನ, ಸಿಂಗಿಯನಾರೋಗಿಸಿದಿರಿ.
ಸಂಜೆ ಸಮಾಧಿಗಳಿಲ್ಲದ ಮುನ್ನ ಉಂಡಿರಿ ಚನ್ನನ ಮನೆಯಲ್ಲಿ.
ಚಿತ್ರಗುಪ್ತರರಿಯದ ಮುನ್ನ ಎತ್ತಿದಿರಿ ಕಾಂಚಿಯ ಪುರವ,
ಬೈಚಿಟ್ಟಿರಿ ಕೈಲಾಸದಲ್ಲಿ.
ನಿಮ್ಮ ಚಿಕ್ಕುಟ ಉದರದಲ್ಲಿ ಈರೇಳು ಭುವನಂಗಳೆಲ್ಲವು.
ನಿಮ್ಮ ರೋಮಕೂಪದಲ್ಲಿ ಅಡಗಿದವು;
ಪ್ರಾಣ ಅಪಾನ ವ್ಯಾನ ಉದಾನ ಸಮಾನ [ಗಳು] – ಗುಹೇಶ್ವರಾ. ॥೩೧॥

೧೪೪

ಕಂಗಳಾಲಿಯ ಕರಿಯ ನಾಳದಲ್ಲಿ, ಈರೇಳು ಭುವನಂಗಳಡಗಿದವು!
ನಾಟಕ ನಾಟಕವ ರಚಿಸುತ್ತ, ಆಡಿಸುವ ಸೂತ್ರದ ಪರಿ,
ಗುಹೇಶ್ವರಲಿಂಗ ನಿರಾಳಚೈತನ್ಯ. ॥೩೨॥

೧೪೫

ಮರನೊಳಗಣ ಪತ್ರೆ ಫಲಂಗಳು, ಮರಕಾಲವಶದಲ್ಲಿ ತೋರುವಂತೆ,
ಹರನೊಳಗಣ ಪ್ರಕೃತಿಸ್ವಭಾವಂಗಳು, ಹರಭಾವದಿಚ್ಛೆಗೆ ತೋರುವವು.
ಲೀಲೆಯಾದಡೆ ಉಮಾಪತಿ, ಲೀಲೆ ತಪ್ಪಿದಡೆ ಸ್ವಯಂಭು ಗುಹೇಶ್ವರಾ. ॥೩೩॥

೧೪೬

ಒಡಿನಲುಂಟೆ ಕನ್ನಡಿಯ ನೋಟ?
ಮರುಳಿನ ಕೂಟ ವಿಪರೀತಚರಿತ್ರ.
ನೋಟದ ಸುಖ ತಾಗಿ ಕೋಟಲೆಗೊಂಡೆನು.
ಗುಹೇಶ್ವರನೆಂಬ ಲಿಂಗವು ಒಬ್ಬನೆ ಅಚಲ.
ಉಳಿದವರೆಲ್ಲರೂ ಸೂತಕಿಗಳು. ॥೩೪॥

೧೪೭

ಎಸೆಯದಿರು ಎಸೆಯದಿರು ಕಾಮಾ,
ನಿನ್ನ ಬಾಣ ಹುಸಿಯಲೇಕೊ?
ಕಾಮ ಕ್ರೋಧ ಲೋಭ ಮೋಹ ಮದ ಮತ್ಸರ – ಇವು ಸಾಲದೆ ನಿನಗೆ ?
ಗುಹೇಶ್ವರಲಿಂಗದ ವಿರಹದಲ್ಲಿ ಬೆಂದವರ,
ಮರಳಿ ಸುಡಲುಂಟೆ ಮರುಳು ಕಾಮಾ ? ॥೩೫॥

೧೪೮

ಸತಿ ಭಕ್ತೆಯಾದಡೆ ಹೊಲೆಗಂಜಲಾಗದು,
ಪತಿ ಭಕ್ತನಾದೆಡೆ ಕುಲಕಂಜಲಾಗದು.
ಸತಿ–ಪತಿಯೆಂಬ ಅಂಗಸುಖ ಹಿಂಗಿ, ಲಿಂಗವೇ ಪತಿಯಾದ ಬಳಿಕ
ಸತಿಗೆ ಪತಿಯುಂಟೆ? ಪತಿಗೆ ಸತಿಯುಂಟೆ?
ಹಾಲುಂಡು ಮೇಲುಂಬರೆ ಗುಹೇಶ್ವರಾ? ॥೩೬॥

೧೪೯

ಉರಿಗೆ ಉರಿಯನೆ ತೋರುವೆನು, ಅಮೃತದ ಕಳೆಯಲ್ಲಿ ನಿಲಿಸುವೆನು.
ನಾನು ಬ್ರಹ್ಮಸ್ಥಾನದಲ್ಲಿ ಗುಹೇಶ್ವರಾ–ನಿರಂತರವಾಗಿರ್ದೆನಯ್ಯಾ. ॥೩೭॥

೧೫೦

ಅದ್ಭುತವೆಂಬ ಪಿಶಾಚಿ ಮೂರುಲೋಕವನವಗ್ರಹಿಸಿತ್ತಯ್ಯಾ!
ಆ ಅದ್ಭುತದೊಳಗೊಂದು ಗ್ರಹ, ನಿರಂತರ ನಲಿದಾಡುತ್ತಿದ್ದಿತ್ತಯ್ಯಾ!
ವಜ್ರಯೋಗಿ ಖಗರಂಧ್ರಪುರದಲ್ಲಿ,
ಗುಹೇಶ್ವರಲಿಂಗವು ತಾನೇ ನೋಡಾ. ॥೩೮॥

೧೫೧

ಅನಲನಾರಣ್ಯದೊಳಗೆ ಎದ್ದಲ್ಲಿ:
ದೂ(ಧು?)ರದೆಡೆಯಲಾರನೂ ಕಾಣೆವು.
ಸಂಗ್ರಾಮಧೀರರೆಲ್ಲರೂ ನೆಲೆಗೆಟ್ಟರಾಗಿ !
ಮಾಯಾಮಂಜಿನ ಕೋಟೆಗೆ. ರಂಜನೆಯ ಕೊತ್ತಳ. ಅಂಜನೆಯ ಕಟ್ಟಳೆ.
ಗುಹೇಶ್ವರನು ಶರಣ ಐಕ್ಯಸ್ಥಲವ ಮೆಟ್ಟಲೊಡನೆ.
ಸರ್ವವೂ ಸಾಧ್ಯವಾಯಿತ್ತು. ॥೩೯॥

೧೫೨

ಪಂಚೇಂದ್ರಿಯ ಸಪ್ತಧಾತುವನತಿಗಳೆದಲ್ಲಿ ಫಲವೇನೊ ?
ಕಾಮ ಕ್ರೋಧ ಲೋಭ ಮೋಹ ಮದ ಮತ್ಸರ–
ವಿಷಯವನತಿಗಳೆದಲ್ಲಿ ಫಲವೇನೊ ?
ಇವೆಲ್ಲವ ಕೊಂದ ಪಾಪ ನಿಮ್ಮ ತಾಗುವುದು–ಗುಹೇಶ್ವರಾ. ॥೪೦॥

೧೫೩

ಲಿಂಗ ಒಳಗೊ ಹೊರಗೊ? ಬಲ್ಲಡೆ ನೀವು ಹೇಳಿರೆ ?
ಲಿಂಗ ಎಡನೊ ಬಲನೊ ? ಬಲ್ಲಡೆ ನೀವು ಹೇಳಿರೆ ?
ಲಿಂಗ ಮುಂದೊ ಹಿಂದೊ ? ಬಲ್ಲಡೆ ನೀವು ಹೇಳಿರೆ ?
ಲಿಂಗ ಸ್ಥೂಲವೊ ಸೂಕ್ಷ್ಮವೊ ? ಬಲ್ಲಡೆ ನೀವು ಹೇಳಿರೆ ?
ಲಿಂಗ ಪ್ರಾಣವೊ, ಪ್ರಾಣ ಲಿಂಗವೊ ?
ಬಲ್ಲಡೆ ನೀವು ಹೇಳಿರೆ ಗುಹೇಶ್ವರಲಿಂಗವನು ? ॥೪೧॥

೧೫೪

ತನು ನಿಮ್ಮ ಪೂಜಿಸುವ ಕೃಪೆಗೆ ಸಂದುದು.
ಮನ ನಿಮ್ಮ ನೆನೆವ ಧ್ಯಾನಕ್ಕೆ ಸಂದುದು.
ಪ್ರಾಣ ನಿಮ್ಮ ನೆರೆವ ರತಿಸುಖಕ್ಕೆ ಸಂದುದು–
ಇಂತು, ತನು ಮನ ಪ್ರಾಣ ನಿಮಗೆ ಸಂದಿಪ್ಪ
ನಿಸ್ಸಂಗಿಯಾದ ನಿಚ್ಚಟ, -ನಿಜಲಿಂಗೈಕ್ಯ ಕಾಣಾ ಗುಹೇಶ್ವರಾ. ॥೪೨॥

೧೫೫

ತನುವಿಂಗೆ ತನುವಾಗಿ, ಮನಕ್ಕೆ ಮನವಾಗಿ, ಜೀವಕ್ಕೆ ಜೀವವಾಗಿ,
ಇದ್ದುದನಾರು ಬಲ್ಲರೊ?
ಅದು ದೂರವೆಂದು, ಸಮೀಪವೆಂದು,
ಮಹಂತ ಗುಹೇಶ್ವರ[ನು], ಒಳಗೆಂದು ಹೊರಗೆಂದು,
ಬರುಸೂರೆವೋದರು. ॥೪೩॥

೧೫೬

ಖೇಚರಪವನದಂತೆ ಜಾತಿಯೋಗಿಯ ನಿಲುವು !
ಮಾತಿನೊಳು ಧಾತು ನುಂಗಿ ಉಗುಳದಿನ್ನೆಂತೊ ?
ಭೂಚಕ್ರವಳಯವನು ಆಚಾರ್ಯ ರಚಿಸಿದ.
ಗ್ರಾಮವೆಲ್ಲವ ಸುಟ್ಟು, ನೇಮ ಸಾಮವ ನುಂಗಿ

ಗ್ರಾಮದ ಪ್ರಭುವನೆ ನುಂಗಿ,
'ಗುಹೇಶ್ವರ ಗುಹೇಶ್ವರ' ಎನುತ ನಿರ್ವಯಲಾಗಿತ್ತು. ॥೪೪॥

**ಸೂತ್ರ:** ಇಂತು ಮಾಹೇಶ್ವರಸ್ಥಲದಲ್ಲಿ ನಿಷ್ಠಾ [ಮುಖ]ದಿಂದ ಆಚರಿಸಿ ಐಕ್ಯವಾದ ಮಾಹೇಶ್ವರನು ಮುಂದೆ ಪ್ರಸಾದಿಸ್ಥಲದಲ್ಲಿ ಸಾವಧಾನಮುಖದಿಂದ ಆಚರಿಸಿ ಬೆರಸುವ ಭೇದವು ಎಂತಿರ್ದುದೆಂದಡೆ – ಮುಂದೆ ಪ್ರಸಾದಿಸ್ಥಲವಾದುದು.



೧೫೭

ಬೇಡದ ಮುನ್ನವೆ ಮಾಡಬಲ್ಲಡೆ ಭಕ್ತಿ
ಬೇಡುವನೆ(ದೆ?) ಲಿಂಗಜಂಗಮವು?
ಬೇಡುವರಿಗೆಯೂ ಬೇಡಿಸಿಕೊಂಬವರಿಗೆಯೂ
ಪ್ರಸಾದವಿಲ್ಲ –ಗುಹೇಶ್ವರಾ. ॥೧॥

೧೫೮

ಲಿಂಗಜಂಗಮ ಒಂದೇ ಎಂದು ಕಂದೊಳಲುಗೊಂಡಿರಲ್ಲಾ!
ಮೂರೆಡೆಯ ಮುಟ್ಟಿತ್ತು ತ್ರಿವಿಧಾಚಾರ;–
ಲಿಂಗ ಒಂದೆಡೆಯಲ್ಲಿ, ಜಂಗಮ ಒಂದೆಡೆಯಲ್ಲಿ, ಪ್ರಸಾದ ಒಂದೆಡೆಯಲ್ಲಿ.
–ಇಂತು ಎಲ್ಲಿಯ ಪ್ರಸಾದವೊ ಗುಹೇಶ್ವರಾ. ॥೨॥

೧೫೯

ಹಸಿವಾಯಿತ್ತೆಂದು ಹುಸಿದು ಮಜ್ಜನಕ್ಕೆರೆವರಯ್ಯಾ.
ತೃಷೆಯಾಯಿತ್ತೆಂದು ಅರ್ಪಿತವ ಮಾಡುವರಯ್ಯಾ.
ಇದೆಂತೊ ಭಕ್ತಸಂಬಂಧ ಇದೆಂತೊ ಶರಣಸಂಬಂಧ?
ಇದೆಂತೊ ಲಿಂಗಸಂಬಂಧ?
ಕಾರಣವಿಲ್ಲದ ಭಕ್ತಿಯ ಕಂಡಡೆ,
ಹೋಗ ನೂಕುವನು ಗುಹೇಶ್ವರಾ. ॥೩॥

೧೬೦

ಪ್ರಾಣವ ಮಾರುವವರಿಂಗೆ ಪ್ರಾಣಲಿಂಗವೆಲ್ಲಿಯದೊ?
ಇಷ್ಟಲಿಂಗಪೂಜಕರೆಲ್ಲ ನೇಮವ ಮಾಡುತ್ತಿಪ್ಪರು.
ಸೂನೆಗಾರಂಗೆ ಪ್ರಸಾದವೆಲ್ಲಿಯದೊ ಗುಹೇಶ್ವರಾ. ॥೪॥

೧೬೧

ಒಳಗ ತೊಳೆಯಲರಿಯದೆ ಹೊರಗ ತೊಳೆದು ಕುಡಿವುತ್ತಿರ್ದರಯ್ಯಾ.
ಪಾದೋದಕ ಪ್ರಸಾದವನರಿಯದೆ.
ಬಂದ ಬಟ್ಟೆಯಲ್ಲಿ ಮುಳುಗುತ್ತೈದಾರೆ ಗುಹೇಶ್ವರಾ. ॥೫॥

೧೬೨

ಮಾಡಿದ ಓಗರ ಮಾಡಿದಂತಿದ್ದಿತ್ತು,
ನೀಡಿದ ಕೈಗಳೆಡೆಯಾಡುತ್ತಿರ್ದವು.
ಲಿಂಗಕರ್ಪಿತವ ಮಾಡಿದೆವೆಂಬರು.
ಒಂದರಲೊಂದು ಸವೆಯದು ನೋಡಾ.
ಲಿಂಗವಾರೋಗಣೆಯ ಮಾಡಿದನೆಂಬರು,
ತಾವುಂಡು ನಿಮ್ಮ ದೂರುವರು ಗುಹೇಶ್ವರಾ. ॥೬॥

೧೬೩

ತಮ್ಮ ತಮ್ಮ ಮುಖದಲ್ಲಿ;
ಲಿಂಗವನೊಲಿಸಿದರು, ಆರಾಧಿಸಿದರು, ಬೇಡಿತ್ತ ಪಡೆದರು ಎಲ್ಲಾ –
ಲಿಂಗಭೋಗೋಪಭೋಗಿಗಳಾಗಿ ಭೋಗಿಸುವವರಿಲ್ಲ.
ಗಂಗೆವಾಳುಕರೆಲ್ಲ ವರಮುಖಿಗಳಾಗಿ
ಮೂರ್ತಿಯಳಿದು ಹೋದರು ಗುಹೇಶ್ವರಾ. ॥೭॥

೧೬೪

ಬೆಳಗಿನೊಳಗಣ ರೂಪ ತಿಳಿದು, ನೋಡಿಯೆ ಕಳೆದು,
ಹಿಡಿಯದೆ ಹಿಡಿದುಕೊಳ್ಳಬಲ್ಲನಾಗಿ – ಆತ ಲಿಂಗಪ್ರಸಾದಿ !
ಜಾತಿ ಸೂತಕವಳಿದು ಶಂಕೆ ತಲೆದೋರದೆ,
ನಿಶ್ಶಂಕನಾಗಿ, – ಆತ ಸಮಯಪ್ರಸಾದಿ!
ಸಕಲ ಭ್ರಮೆಯನೆ ಜರೆದು, ಗುಹೇಶ್ವರಲಿಂಗದಲ್ಲಿ –
ಬಸವಣ್ಣನೊಬ್ಬನೆ [ಅಚ್ಚ]ಪ್ರಸಾದಿ ! ॥೮॥

೧೬೫

ತನುವ ತಾಗದ ಮುನ್ನ, ಮನವ ತಾಗದ ಮುನ್ನ,
ಅಪ್ಯಾಯನ ಬಂದು ಎಡೆಗೊಳ್ಳದ ಮುನ್ನ – ಅರ್ಪಿತವ ಮಾಡಬೇಕು.
ಗುರುವಿನ ಕೈಯಲ್ಲಿ ಎಳತಟವಾಗದ ಮುನ್ನ – ಅರ್ಪಿತವ ಮಾಡಬೇಕು.
ಎಡದ ಕೈಯಲ್ಲಿ ಕಿಚ್ಚು, ಬಲದ ಕೈಯಲ್ಲಿ ಹುಲ್ಲು,
ಉರಿ ಹತ್ತಿತ್ತು ಗುಹೇಶ್ವರಾ ನಿಮ್ಮ ಪ್ರಸಾದಿಯ ! ॥೯॥

೧೬೬

ತನ್ನ ಮುಟ್ಟಿ ನೀಡಿದುದೆ ಪ್ರಸಾದ,
ತನ್ನ ಮುಟ್ಟ [ದೆ] ನೀಡಿದುದೆ ಓಗರ.
ಲಿಂಗಕ್ಕೆ ಕೊಟ್ಟು ಕೊಂಡಡೆ ಪ್ರಸಾದಿ.
ಇದು ಕಾರಣ– ಇಂತಪ್ಪ ಭೃತ್ಯಾಚಾರಿಗಲ್ಲದೆ
ಪ್ರಸಾದವಿಲ್ಲ ಗುಹೇಶ್ವರಾ. ॥೧೦॥

೧೬೭

ಆಧಿ ಇಲ್ಲದಿರ್ದಡೆ ಲಿಂಗಪ್ರಸಾದಿಯೆಂಬೆನು,
ವ್ಯಾಧಿ ಇಲ್ಲದಿರ್ದಡೆ ಜಂಗಮಪ್ರಸಾದಿಯೆಂಬೆನು.
ಲೌಕಿಕವ ಸೋಂಕದಿರ್ದಡೆ ಸಮಯಪ್ರಸಾದಿಯೆಂಬೆನು.
– ಇಂತೀ ತ್ರಿವಿಧ ಪ್ರಸಾದಸಂಬಂಧಿಯಾದಡೆ
ಆತನ ಅಚ್ಚಪ್ರಸಾದಿಯೆಂಬೆನು ಕಾಣಾ– ಗುಹೇಶ್ವರಾ. ॥೧೧॥

೧೬೮

ಸರ್ವಸುಯಿಧಾನಿ ಎಂದೆನಿಸಿಕೊಳ್ಳಬಲ್ಲಡೆ,
ಬಂದ ಕಾಮ ಕ್ರೋಧವ ಲಿಂಗಕ್ಕರ್ಪಿತವ ಮಾಡಬೇಕು.
ಅಲಗಿನ ಕೊನೆಯ ಮೊನೆಯ ಮೇಲಣ ಸಿಂಹಾಸನ
ಹೊರಳಿ ಹೋಗಬಾರದು!
ಶಿವಾಚಾರದ ಧಾರೆ ಮೇರೆ ಮುಟ್ಟದ ಮುನ್ನ,
ಅರ್ಪಿತವ ಮಾಡಬಲ್ಲಡೆ;
ಭಿನ್ನಭಾವವೆಲ್ಲಿಯದೊ– ಗುಹೇಶ್ವರಾ? ॥೧೨॥

೧೬೯

ಅಚ್ಚಪ್ರಸಾದಿ ಅಚ್ಚಪ್ರಸಾದಿ ಎಂಬಿರಿ ಕೇಳಿರಯ್ಯಾ;
ನಿಚ್ಚಕ್ಕೆ ನಿಚ್ಚ ಹುಸಿವ ಹುಸಿಗಳ ಕಂಡೆವಯ್ಯಾ [ನಿಮ್ಮಲ್ಲಿ].
ವಾಯು ಬೀಸದ ಮುನ್ನ, ಆಕಾಶ ಬಲಿಯದ ಮುನ್ನ,
ಲಿಂಗಕ್ಕೆ ಅರ್ಪಿತಮುಖವ ಮರೆದಿರಯ್ಯಾ.
ಭೋಜನವ ಮಾಡಿ ಭಾಜನವನಿಕ್ಕಿಟ್ಟು ಹೋಹ ಹಿರಿಯರಿಗೆ
ಭಂಗ ನೋಡಾ ಗುಹೇಶ್ವರಾ. ॥೧೩॥

೧೭೦

ಅನುಭಾವದಿಂದ ಹುಟ್ಟಿತ್ತು ಲಿಂಗ,
ಅನುಭಾವದಿಂದ ಹುಟ್ಟಿತ್ತು ಜಂಗಮ,

ಅನುಭಾವದಿಂದ ಹುಟ್ಟಿತ್ತು ಪ್ರಸಾದ.
ಅನುಭಾವ ಅನುವಿನಲ್ಲಿ ಗುಹೇಶ್ವರಲಿಂಗವನುಪಮ ಸುಖಿ. ||೧೪||

೧೭೧

ಮನಬೀಸರವೆಂಬ ಗಾಳಿ ಬೀಸಿತ್ತು, ವಿದ್ಯಾಮುಖದ ಜ್ಯೋತಿ ನಂದಿತ್ತು.
ಕತ್ತಲೆಯಲ್ಲಿ ಗತಿಯ ಕಾಣದೆ ದುಮ್ಮಾನ ನೆಲೆಗೊಂಡಿತ್ತು.
ಸುಮ್ಮಾನ ಹೋಯಿತ್ತು.
ಸಕಳಕಲಾವಿದ್ಯಾಗುರುವಲ್ಲಾ! ಮತಿತಾಳವೆಂಬ ಗುಹ್ಯತಾಗಿ,
ಸುತಾಳವೆಂಬ ಶರಣಸಂಗದಲ್ಲಿ ಬಿದ್ದು,
ಗುರುವಿಂಗೆ ಪ್ರಸಾದವಾದುದು, ಶಿಷ್ಯಂಗೆ ಓಗರವಾದುದು ನೋಡಾ!
ಲೌಕಿಕಕಾಯಕ ನರಕ (ಲೌಕಿಕ ನಾಯಕನರಕ?)
ಅರ್ಪಿತಮುಖವನರಿಯದೆ, ಅನರ್ಪಿತಮುಖವಾಯಿತ್ತು ಗುಹೇಶ್ವರ ||೧೫||

೧೭೨

ಪದವನರ್ಪಿಸಬಹುದಲ್ಲದೆ, ಪದಾರ್ಥವನರ್ಪಿಸಬಾರದು.
ಓಗರವನರ್ಪಿಸಬಹುದಲ್ಲದೆ, ಪ್ರಸಾದವನರ್ಪಿಸಬಾರದು.
ಗುಹೇಶ್ವರಾ ನಿಮ್ಮ ಶರಣರು,
ಹಿಂದ ನೋಡಿ ಮುಂದನರ್ಪಿಸುವರು. ||೧೬||

೧೭೩

ಘನವಪ್ಪ ಬೋನವನು ಒಂದು ಅನುವಿನ ಪರಿಯಾಣದಲ್ಲಿ ಹಿಡಿದು,
ಗುರುಲಿಂಗವಾರೋಗಣೆಯ ಮಾಡಿ ಮಿಕ್ಕುದು ಪ್ರಸಾದ.
ಈ ತೆರೆದ ಘನವಪ್ಪ ಲಿಂಗವನು,
ಒಂದನುವಿನಲ್ಲಿ ತಂದಿರಿಸಿ,
ಘನವಪ್ಪ ಬೋನವನು ಲಿಂಗವಾರೋಗಣೆಯ ಮಾಡಿ,
ಮಿಕ್ಕುದ ಕೊಳ್ಳಬಲ್ಲಡೆ ಪ್ರಸಾದಿ.–
ಇಂತೀ ತೆರನ ಬೆಸಗೊಳ್ಳಬಲ್ಲಡೆ,
ಎನ್ನ ಬೆಸಗೊಳ್ಳಿ–ಗುಹೇಶ್ವರಾ. ||೧೭||

**ಸೂತ್ರ:** ಇಂತು ಪ್ರಸಾದಿಸ್ಥಲದಲ್ಲಿ ಸಾವಧಾನಮುಖದಿಂದ ಆಚರಿಸಿ ಐಕ್ಯವಾದ ಪ್ರಸಾದಿಯು ಮುಂದೆ ಅನುಭವಮುಖದಿಂದ ಆಚರಿಸಿ ಬೆರಸುವ ಭೇದವೆಂತಿರ್ದುದೆಂದಡೆ –ಮುಂದೆ ಪ್ರಾಣಲಿಂಗಿಸ್ಥಲವಾದುದು.



೧೭೪

ಕದಳಿಯ ಬನವ ಹೊಕ್ಕು ಹೊಲಬ ತಿಳಿಯದನ್ನಕ್ಕ,
ಬಯಲ ಗಾಳಿಯ ಹಿಡಿದು ಗಟ್ಟಿ ಮಾಡದನ್ನಕ್ಕ,
ಬರಿದೆ ಬಹುದೆ ಶಿವಜ್ಞಾನ?
ಷಡುವರ್ಣ(ರ್ಗ?)ವಳಿಯದನ್ನಕ್ಕ, ಬರಿದೆ ಬಹುದೆ?
ಅಷ್ಟಮದವಳಿಯದನ್ನಕ್ಕ [ಬರಿದೆ ಬಹುದೆ?]
ಮದಮತ್ಸರ ಮಾಡಲಿಲ್ಲ, ಹೊದಕುಳಿಗೊಳಲಿಲ್ಲ,
ಗುಹೇಶ್ವರಲಿಂಗ ಕಲ್ಪಿತದೊಳಗಿಲ್ಲ. ॥೧॥

೧೭೫

ಶಬ್ದ ಸ್ಪರ್ಶ ರೂಪು ರಸ ಗಂಧ, ಪಂಚ ಇಂದ್ರಿಯ,
ಸಪ್ತಧಾತು ಅಷ್ಟಮದದಿಂದ ಮುಂದುಗಾಣದವರು
ನೀವು ಕೇಳಿರೆ:
ಲಿಂಗದ ವಾರ್ತೆಯ ವಚನದಲ್ಲಿ ರಚನೆಯ ಮಾಡುವ (ವಿ?) ರಯ್ಯಾ,
ಸಂಸಾರದ ಮಚ್ಚು ಬಿಡದನ್ನಕ್ಕ, ಸೂಕ್ಷ್ಮ ಶಿವಪಥವು ಸಾಧ್ಯವಾಗದು.
ಗುಹೇಶ್ವರಲಿಂಗದಲ್ಲಿ ವಾಕು ಪಾಕವಾದಡೇನೊ,
ಮನ ಪಾಕವಾಗದನ್ನಕ್ಕ ? ॥೨॥

೧೭೬

ಮರ್ತ್ಯಲೋಕದ ಮಾನವರು;
ದೇಗುಲದೊಳಗೊಂದು ದೇವರ ಮಾಡಿದಡೆ,
ಆನು ಬೆರಗಾದೆನು.
ನಿಚ್ಚಕ್ಕೆ ನಿಚ್ಚ ಅರ್ಚನೆ ಪೂಜೆಯ ಮಾಡಿಸಿ,
ಭೋಗವ ಮಾಡುವರ ಕಂಡು ನಾನು ಬೆರಗಾದೆನು.
ಗುಹೇಶ್ವರಾ ನಿಮ್ಮ ಶರಣರು, ಹಿಂದೆ ಲಿಂಗವನಿರಿಸಿ ಹೋದರು. ॥೩॥

೧೭೭

ಬರಿಯ ನಚ್ಚಿನ ಮಚ್ಚಿನ ಭಕ್ತರು,
ಲಿಂಗವ ಮುಟ್ಟಿಯೂ ಮುಟ್ಟದ ಒಳಲೊಟ್ಟಿಗಳು,
ನೆರೆದು ಗಳಹುತ್ತಿಪ್ಪರು.

ತಮ ತಮಗೆ ಅನುಭಾವವ ನುಡಿವರು.
ಅನುಭಾವದ ಆಯತವನರಿಯದಿರ್ದರೆ ಹಿಂದಣ ಅನುಭಾವಿಗಳು?
ಗುಹೇಶ್ವರಲಿಂಗದ ಸುಖವನು ಮುಟ್ಟಿದರೆ,
ಮರಳಿ ಭವಕಲ್ಪಿತವೆಲ್ಲಿಯದೊ? ॥೪॥

೧೭೮

ಭಾವದಲೊಬ್ಬ ದೇವರ ಮಾಡಿ,
ಮನದಲೊಂದು ಭಕ್ತಿಯ ಮಾಡಿದಡೆ,
ಕಾಯದ ಕೈಯಲ್ಲಿ ಕಾರ್ಯವುಂಟೆ?
ವಾಯಕ್ಕೆ ಬಳಲುವರು ನೋಡಾ.
ಎತ್ತನೇರಿ ಎತ್ತನರಸುವರು, ಎತ್ತ ಹೋದರೈ ಗುಹೇಶ್ವರಾ? ॥೫॥

೧೭೯

ಹೊಟ್ಟೆಯ ಮೇಲೆ ಕಟ್ಟೋಗರದ ಮೊಟ್ಟೆಯ ಕಟ್ಟಿದಡೇನು?
ಹಸಿವು ಹೋಹುದೆ?
ಅಂಗದ ಮೇಲೆ ಲಿಂಗಸ್ವಾಯತವಾದಡೇನು?
ಭಕ್ತನಾಗಬಲ್ಲನೆ?
ಇಟ್ಟ ಕಲ್ಲು ಮೆಳೆಯ ಮೇಲೆ ಸಿಲುಕಿದಡೆ,
ಆ ಕಲ್ಲು ಲಿಂಗವೆ? ಆ ಮೆಳೆ ಭಕ್ತನೆ? ಇಟ್ಟಾತ ಗುರುವೆ?
ಇಂತಪ್ಪವರ ಕಂಡಡೆ ನಾಚುವೆನಯ್ಯಾ — ಗುಹೇಶ್ವರಾ. ॥೬॥

೧೮೦

ಅಸ್ಥಿಗೆ ಚರ್ಮವಾಧಾರವಾಗಿ, ಪ್ರಾಣಕ್ಕೆ ಪ್ರಸಾದ ಮೃತ್ತಿಕೆಯಾಗಿ(ಗೆ?)
ಪ್ರಾಣ ಲಿಂಗವಲ್ಲೊ!
ಪ್ರಾಣಲಿಂಗವೆಂಬುದು ಕರಕಷ್ಟ ನೋಡಾ.
ಪ್ರಾಣಲಿಂಗವೆಂಬುದು ಕರನಾಚಿಕೆ ನೋಡಾ.
ಒಡೆದ ಮಡಕೆಗೆ ಒತ್ತಿ ಮಣ್ಣ ಮೆತ್ತಿದಡೆ,
ಅದು ತರಪರವಾಗಬಲ್ಲುದೆ ಗುಹೇಶ್ವರಾ? ॥೭॥

೧೮೧

ಇಷ್ಟಲಿಂಗವನು ಪ್ರಾಣಲಿಂಗವೆಂಬ ಕಷ್ಟವೆಲ್ಲಿಯದೊ?
ಇಷ್ಟಲಿಂಗ ಹೋದಡೆ ಪ್ರಾಣಲಿಂಗ ಹೋಗದು ನೋಡಾ.

ಇಷ್ಟಲಿಂಗ ಪ್ರಾಣಲಿಂಗದ ಭೇದವನು
ಗುಹೇಶ್ವರಾ, ನಿಮ್ಮ ಶರಣ ಬಲ್ಲ. ॥೮॥

೧೮೨

ವ್ರತಗೇಡಿ ವ್ರತಗೇಡಿ ಎಂಬವ, ತಾನೆ ವ್ರತಗೇಡಿ.
ವ್ರತ ಕೆಡಲಿಕೇನು ಹಾಲಂಬಿಲವೆ?
ವ್ರತ ಕೆಟ್ಟ ಬಳಿಕ ಘಟ ಉಳಿಯಬಲ್ಲುದೆ ?
ಕಾಯದೊಳಗೆ ಜೀವವುಳ್ಳನ್ನಕ್ಕ
ಅದೇ ಪ್ರಾಣಲಿಂಗವು ಕಾಣಾ ಗುಹೇಶ್ವರಾ. ॥೯॥

೧೮೩

ಅಂಗದ ಕಳೆಯಲೊಂದು ಲಿಂಗವ ಕಂಡೆ.
ಲಿಂಗದ ಕಳೆಯಲೊಂದು ಅಂಗವ ಕಂಡೆ.
ಅಂಗ ಲಿಂಗ[ದ] ಸಂದಣಿಯನರಸಿ ಕಂಡೆ, ನೋಡಿರೆ.
ಇಲ್ಲಿಯೆ ಇದಾನೆ ಶಿವನು ! ಬಲ್ಲಡೆ ಇರಿಸಿಕೊಳ್ಳಿರೆ;
ಕಾಯವಳಿಯದ ಮುನ್ನ ನೋಡಬಲ್ಲಡೆ.
ಗುಹೇಶ್ವರಲಿಂಗಕ್ಕೆ ಬೇರೆ ಠಾವುಂಟೆ ಹೇಳಿರೆ ? ॥೧೦॥

೧೮೪

ಪೂಜಿಸಿ ಕೆಳಯಿಂಕೆ ಇಳುಹಲದೇನೊ?
ಅನಾಗತ (ಅನಾಯತ?) ಪೂಜೆಯ ಮಾಡಲದೇನೊ?
ದೇಹವೆ ಪಿಂಡಿಗೆ, ಜೀವವೆ ಲಿಂಗ–ಗುಹೇಶ್ವರಾ. ॥೧೧॥

೧೮೫

ಅರಿದರಿದು ಅರಿವು ಬರುದೊರೆವೋಯಿತ್ತು.
ಕರುಹ ತೋರಿದೊಡಿಂತು ನಂಬರು.
ತೆರಹಿಲ್ಲದ ಘನವ ನೆನೆದು
ಗುರು ಶರಣು ಶರಣೆಂಬುದಲ್ಲದೆ,
ಮರಹು ಬಂದಿಹುದೆಂದು, ಗುರು ಕುರುಹ ತೋರಿದನಲ್ಲದೆ
ಅರಿಯಬಲ್ಲಡೆ ಗುಹೇಶ್ವರನೆಂಬ ಲಿಂಗವು, ಹೃದಯದಲ್ಲೈದಾನೆ. ॥೧೨॥

೧೮೬

ಸಂಬಂಧ ಅಸಂಬಂಧವೆಂದು ಹೆಸರಿಟ್ಟುಕೊಂಡು ನುಡಿವಿರಿ.
ಸಂಬಂಧವಾವುದು? ಅಸಂಬಂಧವಾವುದು ? – ಬಲ್ಲಡೆ ನೀವು ಹೇಳಿರೆ?
ಕಾಯಸಂಬಂಧ ಜೀವಸಂಬಂಧ ಪ್ರಾಣಸಂಬಂಧ–
ಇಂತೀ ತ್ರಿವಿಧಸಂಬಂಧವನರಿದಡೆ
ಆತನೆ ಸಂಬಂಧಿ ಕಾಣಾ ಗುಹೇಶ್ವರಾ. ॥೧೩॥

೧೮೭

ಭಾನು ಶಶಿ ಕಳೆಗುಂದಿ,
ಪ್ರಾಣ ಅಪಾನ ವ್ಯಾನ ಉದಾನ ಸಮಾನವೆಂಬ
ನಾಗ ಕೂರ್ಮ ಕೃಕರ ದೇವದತ್ತ ಧನಂಜಯವೆಂಬ–
ವಾಯುವನರಿಯವೊ!
ಆದಿಪ್ರಣಮವನರಿದಹೆನೆಂಬವಂಗೆ.
ಬಯಲು ಆಕಾಶದೊಳಗೊಂದು ರಸದ ಬಾವಿ!
ಮುನ್ನಾದವರೆಲ್ಲಿಯವರೆಂದೆನಬೇಡ
ಗುಹೇಶ್ವರನೆಂಬ ಲಿಂಗವು ತಾನೆ ಕಂಡೆಲವೊ! ॥೧೪॥

೧೮೮

ಗುದಸ್ಥಾನದಲ್ಲಿ ಆಧಾರಚಕ್ರ, ಪೃಥ್ವಿಯೆಂಬ ಮಹಾಭೂತ.
ಚತುಃಕೋಣೆ ಚೌದಳ ಪದ್ಮ, ಅಲ್ಲಿ ಇಹ ಅಕ್ಷರ ನಾಲ್ಕು–ವ. ಶ. ಷ. ಸ.
ಅದರ ವರ್ಣ ಸುವರ್ಣ. ಅದಕ್ಕೆ ಅಧಿದೇವತೆ ದಾಕ್ಷಾಯಣಿ.

ಲಿಂಗಸ್ಥಾನದಲ್ಲಿ ಸ್ವಾದಿಷ್ಠಾನಚಕ್ರ, ಅಪ್ಪುವೆಂಬ ಮಹಾಭೂತ.
ಧನುರ್ಗತಿ. ಷಡುದಳ ಪದ್ಮ, ಅಲ್ಲಿ ಇಹ ಅಕ್ಷರವಾರು–ಬ. ಭ. ಮ. ಯ. ರ. ಲ.
ಅದರ ವರ್ಣ ಪಚ್ಚೆಯ ವರ್ಣ, ಅದಕ್ಕೆ ಅಧಿದೇವತೆ ಬ್ರಹ್ಮನು.

ನಾಭಿಸ್ಥಾನದಲ್ಲಿ ಮಣಿಪೂರಕವೆಂಬಚಕ್ರ. ತೇಜವೆಂಬ ಮಹಾಭೂತ.
ತ್ರಿಕೋಣೆ. ದಶದಳ ಪದ್ಮ ಅಲ್ಲಿ ಇಹ ಅಕ್ಷರ ಹತ್ತು–
ಡ. ಢ. ಣ. ತ. ಥ. ದ. ಧ. ನ. ಪ. ಫ.
ಅದರ ವರ್ಣ ಕೃಷ್ಣವರ್ಣ. ಅದಕ್ಕೆ ಅಧಿದೇವತೆ ವಿಷ್ಣು.

ಹೃದಯಸ್ಥಾನದಲ್ಲಿ ಅನಾಹತಚಕ್ರ. ವಾಯುವೆಂಬ ಮಹಾಭೂತ.
ಷಟ್ಕೋಣೆ. ದ್ವಾದಶಗಳ ಪದ್ಮ ಅಲ್ಲಿ ಇಹ ಅಕ್ಷರ ಹನ್ನೆರಡು–

ಕ, ಖ, ಗ, ಘ, ಙ, ಚ, ಛ, ಜ, ಝ, ಞ, ಟ, ಠ,
ಅದರ ವರ್ಣ ಕುಂಕುಮವರ್ಣ, ಅದಕ್ಕೆ ಅಧಿದೇವತೆ ಮಹೇಶ್ವರನು.

ಕಂಠಸ್ಥಾನದಲ್ಲಿ ವಿಶುದ್ಧಿ ಚಕ್ರ, ಆಕಾಶವೆಂಬ ಮಹಾಭೂತ,
ವರ್ತುಲಾಕಾರ, ಷೋಡಶದಳ ಪದ್ಮ ಅಲ್ಲಿ ಇಹ ಅಕ್ಷರ ಹದಿನಾರು –
ಅ, ಆ, ಇ, ಈ, ಉ, ಊ, ಋ, ೠ, ಌ, ೡ, ಏ, ಐ, ಓ, ಔ, ಅಂ, ಅಃ,
ಅದರ ವರ್ಣ ಶ್ವೇತವರ್ಣ, ಅದಕ್ಕೆ ಅಧಿದೇವತೆ ಸದಾಶಿವನು.

ಭ್ರೂಮಧ್ಯಸ್ಥಾನದಲ್ಲಿ ಆಜ್ಞಾಚಕ್ರ, ಮನವೆಂಬ ಮಹಾಭೂತ,
ತಮಂಧಾಕಾರ, ದ್ವಿದಳಪದ್ಮ ಅಲ್ಲಿ ಇಹ ಅಕ್ಷರವೆರಡು– ಹಂ, ಕ್ಷಂ,
ಅದರ ವರ್ಣ ಮಾಣಿಕ್ಯವರ್ಣ, ಅದಕ್ಕೆ ಅಧಿದೇವತೆ ಶ್ರೀಗುರು.

ಉನ್ಮನಿಜ್ಯೋತಿ ಬ್ರಹ್ಮರಂಧ್ರದ ಮೇಲೆ. ಸಹಸ್ರದಳ ಪದ್ಮ.
ಅಲ್ಲಿ ಅಮೃತವಿಹುದು ಅಲ್ಲಿ 'ಓಂ' ಕಾರಸ್ವರೂಪವಾಗಿ
ಗುಹೇಶ್ವರಲಿಂಗವು ಸದಾಸನ್ನಹಿತನು. ॥೧೫॥

೧೮೯

ಆಧಾರ ಸ್ವಾದಿಷ್ಠಾನ ಮಣಿಪೂರಕಸ್ಥಾನವರಿಯರು.
ಅಷ್ಟದಳ ಕಮಲದಲ್ಲಿ ಸೂಕ್ಷ್ಮ ನಾಳವೈದುವದೆ?
ಇನ್ನೇನನರಿವರಾರೊ? ಬೇರೆ ಮತ್ತೆ ಅರಿಯಲುಂಟೆ ಹೇಳಾ?
ಸಹಸ್ರದಳಕಮಲದ ಬ್ರಹ್ಮರಂಧ್ರದಲ್ಲಿಪ್ಪ
ಅಮೃತಸ್ವರವನರಿದು, ಹಿಡಿದುಕೊಂಬುದು, ಅರಿದು! – ಗುಹೇಶ್ವರಾ. ॥೧೬॥

೧೯೦

ಆಧಾರ ಲಿಂಗ ನಾಭಿ ಹೃದಯ ಕಂಠ ಭ್ರೂಮಧ್ಯದ ಮೇಲೆ
ನಿಂದುದದೇನೊ?
ನಿತ್ಯ ನಿರಂಜನ ನಿರುಪಾಧಿಕರೇಖೆಯಾಗಿ,
ಇರ್ದುದದೇನೊ?
ವಿದ್ರುಮಕುಸುಮಚಕ್ಷು ಪರಿಮಳದಿಂದತ್ತತ್ತಲೆ. –
ಗುಹೇಶ್ವರನೆಂಬುದದೇನೊ? ॥೧೭॥

೧೯೧

ಘಟಸರ್ಪನಂತೆ ಅತಿಶಯವು !
ನಾಭಿಸರವರಸ್ಥಾನಕವೆ ದಳವೆಂಟು !

ನವದಳಕಮಲ ಊರ್ಧ್ವಮಂಡಲದ ಅಮೃತಸೇವನೆಯಾಗಿ,
ಶಿವಯೋಗಿಯಾದೆವೆಂಬರು.
ಗುಹೇಶ್ವರಲಿಂಗವು ಪವನವಿಯೋಗ ! ॥೧೮॥

೧೯೨

ಅರ್ಕನ ಅದ್ಭುತದಲ್ಲಿ ಕೆಟ್ಟರು ಹಲಬರು,
ತಪ್ಪುಕರಾದರು ಹಲಬರು.
ಬಿಂದು ಬಿಂದುವನೆ ಕೂಡಿ ಲಿಂಗಲೀಯವಾಯಿತ್ತು.
ನಿಂದನು ಗುಹೇಶ್ವರನೆನ್ನೊಳಗೆ ಭರಿತನಾಗಿ. ॥೧೯॥

೧೯೩

ಉದಕ ಮೂರುತಿಯಾಗಿ ಉದಯವಾಯಿತ್ತು ಪಿಂಡಿಗೆಯಲ್ಲಿ.
ಅಲ್ಲಿಯೆ ಮೂಲಸ್ಥಾನ ಸ್ಥಾಪ್ಯವಾಯಿತ್ತು ಸ್ವದೇಹ ಶಿವಪುರದಲ್ಲಿ.
ವಾಯು ಪೂಜಾರಿಯಾಗಿ, ಪರಿಮಳದಿಂಡೆಯ ಕಟ್ಟಿ,
ಪೂಜಿಸುತಿರ್ದುದು – ಓ ನವದ್ವಾರಶಿವಾಲಯದ ಆದಿ ಮಧ್ಯಸ್ಥಾನದಲ್ಲಿ!
ಗುಹೇಶ್ವರನೆಂಬುದಲ್ಲಿಯೇ ನಿಂದಿತ್ತು. ॥೨೦॥

೧೯೪

ಕಳಸವುಳ್ಳ ಶಿವಾಲಯವೊಂದಕ್ಕೆ, ಚೌಕದಲ್ಲಿ ಎರಡು ಕಂಬ,
ಮೂರುಭಾವ – ಪೂಜಕರಾರೊ? ಅನುಭಾವಿಗಳಿನ್ನಾರೊ ?
ಪೂಜಿಸುವರಿನ್ನಾರೊ ?
ಇದರ ಸ್ಥಾನದ ನೆಲಗತಿಯನಾರು ಬಲ್ಲರು ಗುಹೇಶ್ವರಾ ? ॥೨೧॥

೧೯೫

ಕಾಲೇ ಕಂಬಗಳಾದವೆನ್ನ, ದೇಹವೇ ದೇಗುಲವಾಯಿತ್ತಯ್ಯಾ !
ಎನ್ನ ನಾಲಗೆಯೆ ಗಂಟೆ, ಶಿರ ಸುವರ್ಣದ ಕಳಸ – ಇದೇನಯ್ಯಾ !
ಸರವೆ ಲಿಂಗಕ್ಕೆ ಸಿಂಹಾಸನವಾಗಿದ್ದಿತ್ತಯ್ಯಾ.
ಗುಹೇಶ್ವರಾ ನಿಮ್ಮ ಪ್ರಾಣಲಿಂಗಪ್ರತಿಷ್ಠೆ,
ಪಲ್ಲಟವಾಗದಂತಿದ್ದೆನಯ್ಯಾ. ॥೨೨॥

೧೯೬

ಅಚಲಸಿಂಹಾಸನವನಿಕ್ಕಿ;
ನಿಶ್ಚಲ ಮಂಟಪದ ಸಂಚದೋವರಿಯೊಳಗೆ;
ರುಚಿಗಳೆಲ್ಲವ ನಿಲಿಸಿ –
ಪಂಚರತ್ನದ ಶಿಖರ, ಮಿಂಚುಕೋಟಿಯ ಕಳಸ,
ವಚನ ವಿಚಿತ್ರದ ಪುಷ್ಪದ ರಚನೆ[ಯ] ನವರಂಗದಲ್ಲಿ,
ಖೇಚರಾದಿಯ ಗಮನ.
ವಿಚಾರಿಪರ ನುಂಗಿ. – ಗುಹೇಶ್ವರ ನಿಂದ ನಿಲುವು
ಸಚರಾಚರವ ನುಂಗಿತ್ತು ! ॥೨೩॥

೧೯೭

ಭುವರ್ಲೋಕದ ಸ್ಥಾವರಕ್ಕೆ,
ಸತ್ಯಲೋಕದ ಅಗ್ಘಣಿಯಲ್ಲಿ ಮಜ್ಜನಕ್ಕೆರೆದು,
ದೇವಲೋಕದ ಪುಷ್ಪದಲ್ಲಿ ಪೂಜೆಯ ಮಾಡಿದಡೆ
ಹತ್ತು ಲೋಕದಾಚಾರ ಕೆಟ್ಟಿತ್ತು.
ಮೂರು ಲೋಕದರಸುಗಳು ಮುಗ್ಧರಾದರು.
ಗುಹೇಶ್ವರಲಿಂಗವು ಸ್ಥಾವರಕ್ಕೆ ಸ್ಥಾವರವಾದನು. ॥೨೪॥

೧೯೮

ಪ್ರಾಣಲಿಂಗಕ್ಕೆ ಕಾಯವೆ ಸಜ್ಜೆ, ಆಕಾಶಗಂಗೆಯಲ್ಲಿ ಮಜ್ಜನ.
ಹೂವಿಲ್ಲದ ಪರಿಮಳದ ಪೂಜೆ!
ಹೃದಯಕಮಳದಲ್ಲಿ 'ಶಿವಶಿವಾ' ಎಂಬ ಶಬ್ದ –
ಇದು, ಅದ್ವೈತ ಕಾಣಾ ಗುಹೇಶ್ವರಾ. ॥೨೫॥

೧೯೯

ಪೃಥ್ವಿ ಅಪ್ಪು ತೇಜ ವಾಯು ಆಕಾಶ ಪಂಚಭೌತಿಕ,
ಮನೋಬುದ್ಧಿ ಚಿತ್ತ ಅಹಂಕಾರ ಚತುಷ್ಟಯ ಕರಣಂಗಳು,
ಸತ್ವ ರಜ ತಮದಲ್ಲಿ – ಆತ್ಮನ ಎತ್ತಲೆಂದರಿಯರು!
ಇದನರಿದಡೆ; ಸಮತೆ ಸದಾಚಾರ ಆಶ್ರಮಸ್ಥಾನಕ
ಸಹಸ್ರದಳಕಮಲದಲ್ಲಿ ಗುಹೇಶ್ವರಲಿಂಗವು. ॥೨೬॥

೨೦೦

ಕಕ್ಷೆ ಕರಸ್ಥಲ ಕಂಠ ಉತ್ತಮಾಂಗ ಮುಖಸೆಜ್ಜೆ ಅಂಗಂಸೋಂಕೆಂಬದು;
ಷಡುಸ್ಥಲದರುಶನಾದಿಗಳಿಗೆ, ಬಹಿರಂಗದಲ್ಲಿ ವೇಷಲಾಂಛನವಯ್ಯಾ.
ಅಂತರಂಗದಲ್ಲಿ ನಾಲ್ಕು ಸ್ಥಲ;
ಬ್ರಹ್ಮರಂಧ್ರ ಭ್ರೂಮಧ್ಯ ನಾಶಿಕಾಗ್ರ ಚೌಕಮಧ್ಯ,
– ಇಂತೀ ಸ್ಥಾನಂಗಳನರಿಯರಾಗಿ!
ಬ್ರಹ್ಮರಂಧ್ರದಲ್ಲಿ ಲಿಂಗಸ್ವಾಯತ, ಭ್ರೂಮಧ್ಯದಲ್ಲಿ ಜಂಗಮಸ್ವಾಯತ,
ನಾಶಿಕಾಗ್ರದಲ್ಲಿ ಪ್ರಸಾದಸ್ವಾಯತ, ಚೌಕಮಧ್ಯದಲ್ಲಿ ಅನುಭಾವಸ್ವಾಯತ,
ಅಷ್ಟದಳಕಮಲದಲ್ಲಿ ಸರ್ವಸ್ವಾಯತ.–
ಇದು ಕಾರಣ ಗುಹೇಶ್ವರಾ ನಿಮ್ಮ ಶರಣರು ಸದಾ ಸನ್ನಹಿತರು. ॥೨೭॥

೨೦೧

ಆಧಾರದಲ್ಲಿ ಬ್ರಹ್ಮ ಸ್ವಾಯತವಾದ, ಸ್ವಾದಿಷ್ಠಾನದಲ್ಲಿ ವಿಷ್ಣು ಸ್ವಾಯತವಾದ.
ಮಣಿಪೂರಕದಲ್ಲಿ ರುದ್ರ ಸ್ವಾಯತವಾದ, ಅನಾಹತದಲ್ಲಿ ಈಶ್ವರ ಸ್ವಾಯತವಾದ.
ವಿಶುದ್ಧಿಯಲ್ಲಿ ಸದಾಶಿವ ಸ್ವಾಯತವಾದ,
ಆಜ್ಞೆಯಲ್ಲಿ ಉಪಮಾತೀತ ಸ್ವಾಯತವಾದ.–
ಇವರೆಲ್ಲರು; ಬಯಲಲ್ಲಿ ಹುಟ್ಟಿ ಬಯಲಲ್ಲಿ ಬೆಳೆದು,
ಬಯಲಲಿಂಗವನೆ ಧರಿಸಿಕೊಂಡು, ಬಯಲನೆ ಆರಾಧಿಸಿ
ಬಯಲಾಗಿ ಹೋಯಿತ್ತ ಕಂಡೆ ಗುಹೇಶ್ವರಾ. ॥೨೮॥

೨೦೨

ಆಧಾರಲಿಂಗ ಕುಂಡಲಿವಿಡಿದು; ಹೃದಯಕಮಲದಲ್ಲಿ ಬ್ರಹ್ಮ,
ನಾಳದಲ್ಲಿ ವಿಷ್ಣು, ನಾಳಾಗ್ರದಲ್ಲಿ ರುದ್ರ,
ಭ್ರೂಮಧ್ಯದ ಮೇಲೆ ಈಶ್ವರನು, ಬ್ರಹ್ಮರಂಧ್ರದ ಮೇಲೆ ಸದಾಶಿವನು.
ಶಿಖಾಗ್ರದಲ್ಲಿ ಸರ್ವಗತ ಶಿವನು.–
ಆದಿ ಅನಾದಿಯಿಲ್ಲದಂದು ಗುಹೇಶ್ವರಲಿಂಗ ನಿರಾಳನು. ॥೨೯॥

೨೦೩

ಹೊತ್ತಾರೆ ಪೂಜಿಸಲು ಬೇಡ ಕಂಡಾ.
ಬೈಗೆಯೂ ಪೂಜಿಸಲು ಬೇಡ ಕಂಡಾ.
ಇರುಳುವುನು ಹಗಲುವನು ಕಳೆದು,
ಪೂಜೆಯನು ಪೂಜಿಸಲು ಬೇಕು ಕಂಡಾ.

ಇಂತಪ್ಪ ಪೂಜೆಯನು ಪೂಜಿಸುವರ,
ಎನಗೆ ನೀ ತೋರಾ ಗುಹೇಶ್ವರಾ. ॥೩೦॥

೨೦೪

ಅಂಗದಲ್ಲಿ ಮಾಡುವ ಸುಖ, ಲಿಂಗಕ್ಕದು ಭೂಷಣವಾಯಿತ್ತು.
ಕಾಡುಗಿಚ್ಚಿನ ಕೈಯಲ್ಲಿ ಕರಡ ಕೊಯಿಸುವಂತೆ–
ಹಿಂದೆ ಮೆದೆಯಿಲ್ಲ ಮುಂದೆ ಹುಲ್ಲಿಲ್ಲ.
ಅಂಗ ಲಿಂಗವೆಂಬನ್ನಕ್ಕರ ಫಲದಾಯಕ.
ಲಿಂಗೈಕ್ಯವದು ಬೇರೆ ಗುಹೇಶ್ವರಾ. ॥೩೧॥

೨೦೫

ಎನ್ನ ಮನದ ಕೊನೆಯ ಮೊನೆಯ ಮೇಲೆ
ಅಂಗವಿಲ್ಲದ ರೂಪನ ಕಂಡು ಮರುಳಾದೆನವ್ವಾ.
ಆತನ ಕಂಡು ಬೆರಗಾದೆನವ್ವಾ.
ಎನ್ನಂತರಂಗದ ಆತುಮನೊಳಗೆ
ಅನು(ನಿ?)ಮಿಷ ನಿಜೈಕ್ಯ ಗುಹೇಶ್ವರನ ಕಂಡು ! ॥೩೨॥

೨೦೬

ಮನದ ಸುಖವ ಕಂಗಳಿಗೆ ತಂದರೆ,
ಕಂಗಳ ಸುಖವ ಮನಕ್ಕೆ ತಂದರೆ,
ನಾಚಿತ್ತು, ಮನ ನಾಚಿತ್ತು.
ಸ್ಥಾನಪಲ್ಲಟವಾದ ಬಳಿಕ ವ್ರತಕ್ಕೆ ಭಂಗ ಗುಹೇಶ್ವರಾ. ॥೩೩॥

೨೦೭

ಎನಗೊಂದು ಲಿಂಗ ನಿನಗೊಂದು ಲಿಂಗ ಮನೆಗೊಂದು ಲಿಂಗವಾಯಿತ್ತು.
ಹೋಯಿತ್ತಲ್ಲಾ ಭಕ್ತಿ ಜಲವ ಕೂಡಿ.
ಉಳಿ ಮುಟ್ಟದ ಲಿಂಗವ ಮನ ಮುಟ್ಟಬಲ್ಲುದೆ ಗುಹೇಶ್ವರಾ. ॥೩೪॥

೨೦೮

ಅರಳಿಯ ಮರದ ಮೇಲೆ,
ಒಂದು ಹಂಸೆ ಗೂಡನ್ನಿಕ್ಕಿತ್ತ ಕಂಡೆ.

ಆ ಗೂಡಿನೊಳಗೆ,
ಒಬ್ಬ ಹೆಂಗೂಸು ಉಯ್ಯಾಲೆಯಾಡುತ್ತಿರ್ದಳು.
ಉಯ್ಯಾಲೆ ಹರಿದು,
ಹೆಂಗೂಸು ನೆಲಕ್ಕೆ ಬಿದ್ದು ಸತ್ತಡೆ,
ಪ್ರಾಣಲಿಂಗವ ಕಾಣಬಹುದು ಕಾಣಾ ಗುಹೇಶ್ವರಾ. ॥೩೫॥

೨೦೯

ಪೃಥ್ವಿಗೆ ಹುಟ್ಟಿದ ಶಿಲೆ, ಕಲುಕಟಿಗಂಗೆ ಹುಟ್ಟಿದ ಮೂರುತಿ,
ಮಂತ್ರಕ್ಕೆ ಲಿಂಗವಾಯಿತ್ತಲ್ಲಾ!
ಈ ಮೂವರಿಗೆ ಹುಟ್ಟಿದ ಮಗನ (ಮಗುವ?) ಲಿಂಗವೆಂದು ಕೈವಿಡಿವ,
ಅಚ್ಚವ್ರತಗೇಡಿಗಳನೇನೆಂಬೆ ಗುಹೇಶ್ವರಾ. ॥೩೬॥

೨೧೦

ಕಲ್ಲ, ದೇವರೆಂದು ಪೂಜಿಸುವರು—ಆಗದು ಕಾಣಿರೊ.
ಅಗಡಿಗರಾದಿರಲ್ಲಾ !
ಮುಂದೆ ಹುಟ್ಟುವ ಕೂಸಿಂಗೆ
ಇಂದು ಮೊಲೆಯ ಕೊಡುವಂತೆ ಗುಹೇಶ್ವರ ! ॥೩೭॥

೨೧೧

ಮೂರು ಪುರದ ಹೆಬ್ಬಾಗಿಲೊಳಗೊಂದು ಕೋಡಗನ ಕಟ್ಟಿರ್ದುದ ಕಂಡೆ.
ಅದು ಕಂಡಕಂಡವರನೇಡಿಸುತ್ತಿದ್ದಿತ್ತು ನೋಡಾ!
ಆ ಪುರದರಸು ತನ್ನ ಪಾಯದಳ ಸಹಿತ ಬಂದಡೆ,
ಒಂದೆ ಬಾರಿ ಮುರಿದು ನುಂಗಿತ್ತ ಕಂಡೆ.
ಆ ಕೋಡಗಕ್ಕೆ ಒಡಲುಂಟು ತಲೆಯಿಲ್ಲ.
ಕಾಲುಂಟು ಹೆಜ್ಜೆಯಿಲ್ಲ, ಕೈಯುಂಟು ಬೆರಳಿಲ್ಲ.
ಇದು ಕರಚೋದ್ಯ ನೋಡಾ,
ತನ್ನ ಕರೆದವರ ಮುನ್ನವೆ ತಾ ಕರೆವುದು!
ಆ ಕೋಡಗ ತನ್ನ ಬಸುರಲ್ಲಿ ಬಂದ ಮದಗಜದ ನೆತ್ತಿಯನೇರಿ,
ಗಾಳಿಯ ದೂಳಿಯ ಕೂಡಿ ಓಲಾಡುತ್ತಿಹುದ ಕಂಡೆ !
ವಾಯದ ಗಗನದ ಮೇಲೆ ತನ್ನ ಕಾಯವ,
ಪುಟನೆಗೆದು ತೋರುತ್ತಿಹುದ ಕಂಡೆ !
ಹತ್ತು ಮುಖದ ಸರ್ಪನ ತನ್ನ ಹೇಳಿಗೆಯೊಳಗಿಕ್ಕಿ,
ಆಡಿಸುತ್ತಿಹುದ ಕಂಡೆ !

ಐವರು ಕೊಡಗೂಸುಗಳ ಕಣ್ಣಿಂಗೆ,
ಕನ್ನಡಕವ ಕಟ್ಟುತಿಹುದ ಕಂಡೆ !
ಹತ್ತು ಕೇರಿಗಳೊಳಗೆ ಸುಳಿವ ಹರಿಯ ನೆತ್ತಿಯ ಮೆಟ್ಟಿ,
ಹುಬ್ಬೆತ್ತುತ್ತಿಹುದ ಕಂಡೆ !
ಆ ಕೋಡಗದ ಕೈಯೊಳಗೆ ಮಾಣಿಕವ ಕೊಟ್ಟರೆ,
ನೋಡುತ್ತ ನೋಡುತ್ತ ಬೆರಗಾದುದ ಕಂಡೆ !
ಕೂಡಲಿಲ್ಲ ಕಳೆಯಲಿಲ್ಲ;
ಗುಹೇಶ್ವರ[ನ] ನಿಲುವು, ಪ್ರಾಣಲಿಂಗಸಂಬಂಧವಿಲ್ಲದವರಿಗೆ ಕಾಣಬಾರದು. ॥೩೮॥

೨೧೨

ಕಲ್ಲ ಮನೆಯ ಮಾಡಿ ಕಲ್ಲ ದೇವರ ಮಾಡಿ
ಆ ಕಲ್ಲು ಕಲ್ಲ ಮೇಲೆ ಕೆಡೆದಡೆ, ದೇವರೆತ್ತ ಹೋದರೊ ?
ಲಿಂಗಪ್ರತಿಷ್ಠೆಯ ಮಾಡಿದವಂಗೆ ನಾಯಕನರಕ-ಗುಹೇಶ್ವರಾ ॥೩೯॥

೨೧೩

ದೇಹದೊಳಗೆ ದೇವಾಲಯವಿದ್ದು, ಮತ್ತೆ ಬೇರೆ ದೇಗುಲವೇಕಯ್ಯಾ ?
ಎರಡಕ್ಕೆ ಹೇಳಲಿಲ್ಲಯ್ಯಾ.
ಗುಹೇಶ್ವರಾ ನೀನು ಕಲ್ಲಾದಡೆ ನಾನು ಏನಪ್ಪನು ? ॥೪೦॥

೨೧೪

ಒಡಲುವಿಡಿದು ಪಾಷಾಣಕ್ಕೆ ಹಂಗಿಗರಾದಿರಲ್ಲಾ.
ಅಂಗಸಂಗಿಗಳೆಲ್ಲ ಮಹಾಘನವನರಿಯದೆ ನಿಂದಿರೊ!
ಹುಸಿಯನೆ ಕೊಯ್ದು ಹುಸಿಯನೆ ಪೂಜಿಸಿ
ಗಸಣಿಗೊಳಗಾದರು ಗುಹೇಶ್ವರಾ. ॥೪೧॥

೨೧೫

ಆಳುದ್ದಿಯದೊಂದು ಬಾವಿ ಆಕಾಶದ ಮೇಲೆ ಹುಟ್ಟಿತ್ತು ನೋಡಾ !
ಆ ಬಾವಿಯ ನೀರನೊಂದು ಮೃಗ ಬಂದು ಕುಡಿಯಿತ್ತು.
ಕುಡಿಯ ಬಂದ ಮೃಗವು ಆ ನೀರೊಳಗೆ ಮುಳಿಗಿದಡೆ
ಉರಿಯ ಬಾಣದಲೆಚ್ಚು ತೆಗೆದೆ ನೋಡಾ !
ಒಂದೆ ಬಾಣದಲ್ಲಿ ಸತ್ತ ಮೃಗವು,

ಮುಂದಣ ಹೆಜ್ಜೆಯನಿಕ್ಕಿತ್ತ ಕಂಡೆ !
ಅಂಗೈಯೊಳಗೊಂದು ಕಂಗಳು ಮೂಡಿ,
ಸಂಗದ ಸುಖವು ದಿಟವಾಯಿತ್ತು !
ಲಿಂಗಪ್ರಾಣವೆಂಬುದರ ನಿರ್ಣಯವನು ಇಂದು ಕಂಡೆನು ಗುಹೇಶ್ವರಾ. ॥೪೨॥

೨೧೬

ಉದಯ ಮುಖದಲ್ಲಿ ಪೂಜಿಸ ಹೋದರೆ,
ಹೃದಯ ಮುಖದಲ್ಲಿ ಕತ್ತಲೆಯಾಯಿತ್ತು,
ಹಾರಿ ಹೋಯಿತ್ತು ಪ್ರಾಣಲಿಂಗ, ಹರಿದು ಬಿದ್ದಿತ್ತು ಸೆಜ್ಜೆ.
ಕಟ್ಟುವ ಬಿಡುವ ಸಂಬಂಧಿಗಳ ಕಷ್ಟವ ನೋಡಾ ಗುಹೇಶ್ವರಾ. ॥೪೩॥

೨೧೭

ಸೃಷ್ಟಿಯ ಮೇಲಣ ಕಣೆಯ ತಂದು,
ಅಷ್ಟತನುವಿನ ಕೈಯಲ್ಲಿ ಕೊಡಲು,
ಅಷ್ಟತನು ತಪ್ಪಿ ಸೃಷ್ಟಿಯ ಮೇಲೆ ಬಿದ್ದಡೆ– ಕೆಟ್ಟನಲ್ಲಾ,
ಅನಾಚಾರಿಯೆಂದು ಮುಟ್ಟರು ನೋಡಾ,
ಮುಟ್ಟದ ಭೇದವನು, ವಿಖಂಡಿಸಿದ ಭಾವವನು;
ಭಾವವ್ರತಗೇಡಿಗಳು ತಾವೆತ್ತ ಬಲ್ಲರು ಗುಹೇಶ್ವರಾ ? ॥೪೪॥

೨೧೮

ಇರುಳಿನ ಮುಖದೊಳಗೊಂದು ನವರತ್ನದಖಂಡಿತ ಹಾರವಡಗಿತ್ತು.
ಹಗಲಿನ ಮುಖದೊಳಗೊಂದು ನವಚಿತ್ರಪತ್ರದ ವೃಕ್ಷವಡಗಿತ್ತು.
ರತ್ನದ ಹಾರವ ವೃಕ್ಷಕ್ಕಾಹಾರವನಿಕ್ಕಿದಡೆ.
ಗುಹೇಶ್ವರಲಿಂಗದಲ್ಲಿ ಪ್ರಾಣಲಿಂಗಕ್ಕೆ ಸುಖವಾಯಿತ್ತು. ॥೪೫॥

೨೧೯

ಹಿಡಿವ ಕೈಯ [ಮೇ]ಲೆ ಕತ್ತಲೆಯಯ್ಯಾ,
ನೋಡುವ ಕಂಗಳ ಮೇಲೆ ಕತ್ತಲೆಯಯ್ಯಾ,
ನೆರೆವ ಮನದ ಮೇಲೆ ಕತ್ತಲೆಯಯ್ಯಾ.
ಕತ್ತಲೆ ಎಂಬುದು ಇತ್ತಲೆಯಯ್ಯಾ,
ಗುಹೇಶ್ವರನೆಂಬುದು ಅತ್ತಲೆಯಯ್ಯಾ. ॥೪೬॥

೨೨೦

ಅಡವಿಯಲೊಂದು ಮನೆಯ ಮಾಡಿ,
ಆಶ್ರಯವಿಲ್ಲದಂತಾಯಿತ್ತು.
ನಡುನೀರಿನ ಜ್ಯೋತಿಯ, ವಾಯುವಿನ ಕೈಯಲ್ಲಿ ಕೊಟ್ಟಂತಾಯಿತ್ತು.
ಗುಹೇಶ್ವರಾ ನಿಮ್ಮ ಶರಣರು ಎರವಿನ ಲಿಂಗ ಮೂರು ಲೋಕಕ್ಕೆ ! ||೪೭||

೨೨೧

ಕಲ್ಪಿತದುದಯ ಸಂಕಲ್ಪಿತದ ಸುಳುಹು.
ಪವನಭೇದವನರಿಯದೆ,
ಪ್ರಾಣಲಿಂಗವೆಂಬುದು ಅಂಗಸಂಸಾರಿ,
ಜಂಗಮವೆಂಬುದು ಲಿಂಗಸಂಸಾರಿ.
ಪರವಲ್ಲ ಸ್ವಯವಲ್ಲ, ನಿರವಯ,
ಗುಹೇಶ್ವರನೆಂಬ ಲಿಂಗಕ್ಕೆ ನಾಚರು ನೋಡಾ. ||೪೮||

೨೨೨

ಇರುಳಿನ ಸಂಗವ ಹಗಲೆಂದರಿಯರು
ಹಗಲಿನ ಸಂಗವನಿರುಳೆಂದರಿಯರು.
ವಾಯಕ್ಕೆ ನಡೆವರು, ವಾಯಕ್ಕೆ ನುಡಿವರು,
ವಾಯುಪ್ರಾಣಿಗಳು.
ಗುಹೇಶ್ವರನೆಂಬ ಅರುಹಿನ ಕುರುಹು
ಇನ್ನಾರಿಗೆಯೂ ಅಳವಡದು. ||೪೯||

೨೨೩

ಯೋಗದಾಗೆಂಬುದನಾರು ಬಲ್ಲರೊ?
ಅದು ಮೂಗ ಕಂಡ ಕನಸು !
ನಡೆವ ಬಟ್ಟೆ ಮೂರು, ನಡೆಯದ ಬಟ್ಟೆ ಒಂದೆ !
ಒಂದನೊಂಬತ್ತ ಮಾಡಿ ನಡೆದೆಹೆವೆಂಬರು
ಒಂಬತ್ತನೊಂದ ಮಾಡಿ ನಡೆದೆಹೆವೆಂಬ[ನ್ನಕ್ಕರ].
ಮೂರು ಮುಖದ ಕತ್ತಲೆ ಒಂದು ಮುಖವಾಗಿ ಕಾಡುತ್ತಿಪ್ಪುದು.
ಪ್ರಾಣಲಿಂಗಸಂಬಂಧವೆಲ್ಲಿಯದು ಹೇಳಾ ಗುಹೇಶ್ವರಾ. ||೫೦||

೨೨೪

ಆಸನಬಂಧನರು ಸುಮ್ಮನಿರರು.
ಭಸ್ಮವ ಹೂಸಿ ಸ್ವರವ ಹಿಡಿದವರು ಸಾಯದಿಪ್ಪರೆ?
ಸತ್ಯವನೆ ಮರೆದು, ಅಸತ್ಯವನೆ ಹಿಡಿದು,
ಸತ್ತುಹೋದರು ಗುಹೇಶ್ವರಾ. ॥೫೦॥

೨೨೫

ಮನದ ಕತ್ತಲೆಯೊಳಗಣ ಜ್ಯೋತಿಯ ಕೊನೆಯ[ಮೊನೆಯ]ಮೇಲೆ
ಘನವನರಿದೆವೆಂಬರ ಅನುಮಾನಕ್ಕೆ ದೂರ.
ತಮತಮಗೆ ಅರಿದೆವೆಂಬರು,– ಕನಸಿನಲಿಂಗ ಗುಹೇಶ್ವರಾ. ॥೫೨॥

೨೨೬

ತಲೆಯಲಟ್ಟುಂಬುದ, ಒಲೆಯಲಟ್ಟುಂಬರು,
ಒಲೆಯಲುಳ್ಳುದ, ಹೊಟ್ಟೆಯಲುಂಬೈಸಕ್ಕರ
ಹೊಗೆ ಘನವಾಯಿತ್ತು –
ಇದ ಕಂಡು ಹೇಸಿಬಿಟ್ಟೆನು ಗುಹೇಶ್ವರಾ. ॥೫೩॥

೨೨೭

ಉತ್ತರಾಪಥದ ಮೇಲೆ ಮೇಘವರ್ಷ ಕರೆಯಲು,
ಆ ದೇಶದಲ್ಲಿ ಬರನಾಯಿತ್ತು !
ಆ ದೇಶದ ಪ್ರಾಣಿಗಳೆಲ್ಲರೂ ಮೃತವಾದರು!
ಅವರ ಸುಟ್ಟ ರುದ್ರಭೂಮಿಯಲ್ಲಿ,
ನಾ ನಿಮ್ಮನರಸುವೆ ಗುಹೇಶ್ವರಾ. ॥೫೪॥

೨೨೮

ರಸದ ಬಾವಿಯ ತುಡುಕಬಾರದು.
ಕತ್ತರಿವಾಣಿಯ ದಾಂಟಿದವಂಗಲ್ಲದೆ.
ಪರುಷವಿದೆ ಕಬ್ಬುನವಿದೆ ಸಾಧಿಸಬಲ್ಲವಂಗೆ.
ಶ್ರೀಶೈಲದುದಕವ ಧರಿಸಬಾರದು ಗುಹೇಶ್ವರಾ–
ನಿಮ್ಮ ಶರಣಂಗಲ್ಲದೆ. ॥೫೫॥

೨೨೯

ಅಗ್ನಿಯ ಸುಡುವಲ್ಲಿ ಉದಕವ ತೊಳೆವಲ್ಲಿ
ವಾಯುವ ಮೆಟ್ಟಿ ಆಕಾಶವ ಹಿಡಿವಲ್ಲಿ
ಯೋಗದ ಹೊಲಬ ನೀನೆತ್ತ ಬಲ್ಲೆ?
ಕದಳಿಯ ಬನವ ನಿನ್ನಲ್ಲಿ ನೀನು ತಿಳಿದು ನೋಡು,
ಮದ ಮತ್ಸರ ಬೇಡ. ಹೊದಕುಳಿಗೊಳಬೇಡ.
ಗುಹೇಶ್ವರನೆಂಬ ಲಿಂಗವು ಕಲ್ಪಿತವಲ್ಲ ನಿಲ್ಲೊ. ॥೫೬॥

೨೩೦

ಹುಟ್ಟಿದ ನೆಲೆಯ ತೃಷ್ಣೆ ಬಿಡದವರಿಗೆ,
ಲಿಂಗದ ಅನುಭಾವದ ಮಾತೇಕೊ ?
ಮಾತಿನ ಮಾತಿನ ಮಹಂತರು ಹಿರಿಯರು !
ಗುಹೇಶ್ವರನೆಂಬ ಲಿಂಗಸಾರಾಯವು
ಬಹುಮುಖಿಗಳಿಗೆ ತೋರದು, ತೋರದು. ॥೫೭॥

೨೩೧

ಕರ್ಮಾಧೀನವೆಂಬ, ಕರ್ಮಿ. ಲಿಂಗಾಧೀನವೆಂಬ, ಭಕ್ತ.
ದೇಹ ಪ್ರಾರಬ್ಧವೆಂಬ, ದ್ವೈತಿ –
ಈ ತ್ರಿವಿಧವೆನ್ನದವ[ರ], ನೀನೆಂಬೆ ಗುಹೇಶ್ವರಾ. ॥೫೮॥

೨೩೨

ಉದಕದಲುತ್ಪತ್ಯವಾದ ಶತಪತ್ರದಂತೆ
ಸಂಸಾರಸಂಗವ ತಾ ಹೊಗ(ದ್ದ?)ದಿರಬೇಕು.
ಕಾಯವೇ ಪೀಠ, ಮನವೇ ಲಿಂಗವಾದಡೆ,
ಕೊರಳಲ್ಲಿ ನಾಗವತ್ತಿಗೆ ಏಕೊ ಶರಣಂಗೆ ? – ಗುಹೇಶ್ವರಾ ॥೫೯॥

೨೩೩

ತಮ್ಮ ತಮ್ಮ ಭಾವಕ್ಕೆ, ಉಡಿಯಲ್ಲಿ ಕಟ್ಟಿಕೊಂಡ(ಬ?)ರು.
ತಮ್ಮ ತಮ್ಮ ಭಾವಕ್ಕೆ, ಕೊರಳಲ್ಲಿ ಕಟ್ಟಿಕೊಂಡ(ಬ?)ರು.
ನಾನೆನ್ನ ಭಾವಕ್ಕೆ ಪೂಜಿಸ ಹೋದಡೆ,
ಕೈತಪ್ಪಿ ಮನದಲ್ಲಿ ಸಿಲುಕಿತ್ತೆನ್ನ ಲಿಂಗ.
ಸಾಧಕನಲ್ಲ ಭೇದಕನಲ್ಲ – ಗುಹೇಶ್ವರಲ್ಲಯ್ಯ ತಾನೆ ಬಲ್ಲ. ॥೬೦॥

೨೩೪

ನಾನು ಭಕ್ತನಾದಡೆ, ನೀನು ದೇವನಾದಡೆ,
ನೋಡುವೆವೆ ಇಬ್ಬರ ಸಮರಸವನೊಂದು ಮಾಡಿ?
ಭೂಮಿಯಾಕಾಶವನೊಂದು ಮಾಡಿ,
ಚಂದ್ರ–ಸೂರ್ಯರಿಬ್ಬರ ತಾಳವ ಮಾಡಿ ಆಡುವೆವೆ?
ಜಡೆಯ ಮೇಲಣ ಗಂಗೆ ನೀನು ಕೇಳಾ,
ತೊಡೆಯ ಮೇಲಣ ಗೌರಿ ನೀನು ಕೇಳಾ,
ಗುಹೇಶ್ವರನೆಂಬ ಲಿಂಗವು ಎನ್ನ ಕೈಯಲ್ಲಿ ಸತ್ತಡೆ,
ರಂಡೆಗೂಳನುಂಬುದು ನಿಮಗೆ ಲೇಸೆ? ||೬೦||

೨೩೫

ನೀರೊಳಗಣ ಜ್ಯೋತಿ ಮೇರುವ ನುಂಗಿತ್ತು.
ದೂರ[ದ] ಧಾತು ಸಾರಾಯದೊಳಡಗಿತ್ತು.
ಪುರದೊಳಗೈವರ ಶಿರವರಿದು, ಪರಿಮಳದೋಕುಳಿಯನಾಡಿತ್ತ ಕಂಡೆ.
ಸಾರಿರ್ದ ಬ್ರಹ್ಮನ ಓಲಗ ಹರೆಯಿತ್ತು,
ಘೋರ ರುದ್ರನ ದಳ ಮುರಿಯಿತ್ತು–ಗುಹೇಶ್ವರಾ. ||೬೨||

೨೩೬

ಪ್ರಾಣಲಿಂಗವೆಂಬ ಶಬ್ದಕ್ಕೆ ನಾಚಿತ್ತು ಮನ ನಾಚಿತ್ತು.
ಪ್ರಾಣ ಹೋದರೆ ಕಾಯ ಬಿದ್ದಿತ್ತು,
ಲಿಂಗ ಒಂದೆಸೆಯಾದಡೆ ಮನ ನಾಚಿತ್ತು.
ಗುಹೇಶ್ವರನೆನಲಿಲ್ಲದ ಘನವು. ||೬೩||

೨೩೭

ಸರ್ವಾಂಗ ಲಿಂಗಸ್ವಾಯತವಾದ ಶರಣಂಗೆ.
ದೇಹ ದಹನವಾಗಲಾಗದು. ನಿಕ್ಷೇಪಿಸದೆ ಇರಲಾಗದು
ಸಂಸಾರಸಂಗದ ಕಷ್ಟವ ನೋಡಾ !
ಅನಾಹತದಲ್ಲಿ ನಿರೂಪ ಸ್ವಾಯತ,
ಗುಹೇಶ್ವರಾ. ನಿಮ್ಮ ಶರಣರಂತಹರಿಂತಹರೆಂದಡೆ.
ನಾಯಕನರಕ. ||೬೪||

೨೩೮

ಹರಿಯ ಬಾಯ ಹಾಲು, ಉರಿಯ ಕೈಯ ಬೆಣ್ಣೆ
ಗಿರಿಯ ಮೇಲಣ ಶಿಶು ಹರಿದಾಡುತ್ತಿದೆ,
ಕರೆಯಿಂ ಭೋ ಹಾಲುಗುಡಿ[ಯೆ].
ಸುರಪತಿಯ ಗಜವೇರಿ ಮರಳಿ ಹೋಹನ ಕಂಡು
ಕರೆಯಿಂ ಭೋ.
ಹರನ ಮಂತಣಿಯ ಶೂಲದಲ್ಲಿ,
ಶಿರದಲುಂಗುಟ ಊರಿ, ನೆರೆವುತ್ತಿರ್ದುದ
ನಾನೇನೆಂಬೆ ಗುಹೇಶ್ವರಾ. ||೬೫||

೨೩೯

ಹೋಹ ಬಟ್ಟೆಯಲೊಂದು, ಮಾಯ ಇದ್ದುದ ಕಂಡೆ.
ಠಾಣಾಂತರ ಹೇಳಿತ್ತು, ಠಾಣಾಂತರ ಹೇಳಿತ್ತು,
ಅಲ್ಲಲ್ಲಿಗೆ ಅಲ್ಲಲ್ಲಿಗೆ ಅಲ್ಲಲ್ಲಿಗೆ.
ಗುಹೇಶ್ವರನ ಕರಣಂಗಳು ಕುತಾಪಿಗಳು. ||೬೬||

೨೪೦

ಮಂಜರನೇತ್ರದಲ್ಲಿ ಉಭಯಚಂದ್ರರ ಕಾಬವರಾರೊ?
ಕಂಡುದ ದಶರವಿ ಕರದಲ್ಲಿ ಪಿಡಿದು
ಅಗ್ನಿಮುಖಕ್ಕೆ ಸಲಿಸುವರಲ್ಲದೆ, ಲಿಂಗಮುಖಕ್ಕೆ ಸಲಿಸುವರಾರೊ ?
ತದನಂತರ ಪ್ರಾಣಲಿಂಗಕ್ಕೆ ಕೊಟ್ಟು ಕೊಂಬಲ್ಲಿ
ನಿರಂತರ ಸಾವಧಾನಿ ಗುಹೇಶ್ವರಾ—ನಿಮ್ಮ ಪ್ರಸಾದಿ. ||೬೭||

೨೪೧

ಉಲಿವ ಉಯ್ಯಲೆಯ ಹರಿದು ಬಂದೇರಲು,
ತಾಗದೆ ತೂಗುವುದು, ಭವಸಾಗರ ಮರಳಿ ಬಾರದಂತೆ !
ಹಂಸೆಯ ಮೇಲೆ ತುಂಬಿ ಕುಳ್ಳಿರ್ದು ಸ್ವರ ಗೆಯ್ಯುವ ಘೋಷವಿದೇನೊ ?
ಆತನಿರ್ದ ಸರ ಹರಿಯದೆ ಇದ್ದಿತ್ತು.
ದೇಹಿಗಳೆಲ್ಲ ಅರಿವರೆ, ಗುಹೇಶ್ವರನ ಆಹಾರಮುಖವ ? ||೬೮||

೨೪೨

ಐದು ಬಣ್ಣದ ಗಿಡುವಿಂಗೆ ಐದೆಲೆ ಐದು ಹೂ, ಐದು ಕಾಯಾಯಿತ್ತು.
ಮತ್ತೈದರ ಠಾವಿನಲ್ಲಿ, ಐದು ಹೂವಿನ ಕ್ರಮದಲ್ಲಿ
ಹಣ್ಣ ಮೆಲಬಲ್ಲಡೆ, ಗುಹೇಶ್ವರನೆಂಬ ಲಿಂಗವು ತಾನೆ ನೋಡಾ ! ॥೬೯॥

೨೪೩

ಹೃದಯದ ಬಾವಿಯ ತಡಿಯಲ್ಲಿ ಒಂದು ಬಾಳೆ ಹುಟ್ಟಿತ್ತು !
ಆ ಬಾಳೆಯ ಹಣ್ಣ ಮೆಲಬಂದ ಸರ್ಪನ ಪರಿಯ ನೋಡಾ.
ಬಾಳೆ ಬೀಗಿ ಸರ್ಪನೆದ್ದಡೆ–ನಿರಾಳವು ಕಾಣಾ ಗುಹೇಶ್ವರಾ.
॥೭೦॥

೨೪೪

ನಾಭಿಮಂಡಲದೊಳಗೆ ಈರೈದು ಪದ್ಮದಳ,
ಸದಮದ ಗಜಮಸ್ತಕದೊಳಗೆ ತೋರುತ್ತದೆ.
ಅಕಾರ ಉಕಾರ ಮಕಾರ ಮರ್ಮಸ್ಥಾನ ತ್ರಿಕೂಟಸ್ಥಾನದ
ಸಮರಸದ ಸುಖದಲ್ಲಿ ಬೆಳೆದ ಕಂದ ಮೂಲಾದಿಗಳ,
ಹೊಸರಸದ ಅಮೃತವನು ಒಸರಿಸಿ,
ದಣಿಯುಂಡ ತೃಪ್ತಿಯಿಂದ ಸುಖಿಯಾದೆನು ಗುಹೇಶ್ವರಾ. ॥೭೧॥

೨೪೫

ತೆಗೆದು ವಾಯುವ ನೇಣ ಗಗನದಲ್ಲಿ ಗಂಟಿಕ್ಕಿ,
ತ್ರಿಜಗಾಧಿಪತಿಯ ಕೋಣೆಯಲ್ಲಿ ಹಸುವಿದ್ದು,
ಕರುವ ಕೊಂದು ಕಂದಲನೊಡೆದು, ಕರೆಯಬಲ್ಲವಂಗಲ್ಲದೆ,
ಹಯನಾಗದು ನೋಡಾ !
ಹಯನೆ ಬರಡು, ಬರಡೆ ಹಯನು !
ಅರುಹಿರಿಯರ ಬಾಯ, ಕರು ಒದೆದು ಹೋಯಿತ್ತು !
ಎರಡಿಲ್ಲದ ನಿರಾಳ ಗುಹೇಶ್ವರ. ॥೭೨॥

೨೪೬

ಕರಿಯ ತಲೆಯ ಅರಮನೆಯ ಸುರಧೇನು ಹಯನಾಯಿತ್ತು !
ಕರೆದುಂಬಾತಂಗೆ ಕೈಕಾಲಿಲ್ಲ !
ಕರು ನಾಲ್ವೆರಳಿನ ಪ್ರಮಾಣದಲ್ಲಿಹುದು !
ಇದ, ಕರೆದುಂಬಾತನೆ ದೇವ–ಗುಹೇಶ್ವರಾ. ॥೭೩॥

೨೪೭

ಗಗನ ಮಂಡಳದ ಸೂಕ್ಷ್ಮನಾಳದಲ್ಲಿ
'ಸೋಹಂ ಸೋಹಂ' ಎನುತ್ತಿರ್ದತ್ತದೊಂದು ಬಿಂದು,
ಅಮೃತದ ವಾರಿಧಿಯ ದಣಿಯುಂಡ ತೃಪ್ತಿಯಿಂದ.
ಗುಹೇಶ್ವರಾ ನಿಂದ(ನಿಮ್ಮ?)ಲ್ಲಿಯೆ ಎನಗೆ ನಿವಾಸವಾಯಿತ್ತು. ॥೭೪॥

೨೪೮

ಮೊಲೆಯಿಲ್ಲದಾವಿಂಗೆ ತಲೆ[ಯೆ] ಮೊಲೆ !
ಮನದಲ್ಲಿ ಉಣ್ಣು ಕಂಡಾ, ಮನದಲ್ಲಿ ಉಣ್ಣು ಕಂಡಾ !
ತಾ ಸತ್ತು, ಹಾಲ ಕುಡಿಯ ಬಲ್ಲಡೆ,
ಗುಹೇಶ್ವರನೆಂಬ ಲಿಂಗವು ತಾನೆ ಕಂಡಾ ! ॥೭೫॥

೨೪೯

ಅಂಬುಧಿ ಉರಿಯಿತ್ತು ಅವನಿಯ ಮೇಲನರಿಯಲು.
ಕೋಡೆರಡರೊಳೊಂದ ತಿಳಿದು, ವಾಯುವ ಬೈಯುತ್ತ, ತುಂಬಿ
ಅಮೃತವ ಕಂಡು ಪ್ರಾಣನಾಥಂಗೆ ಅರ್ಪಿತವ ಮಾಡಿ,
ಆ ಪ್ರಸಾದದಿಂದ ಸುಖಿಯಾದೆನಯ್ಯಾ – ಗುಹೇಶ್ವರಾ. ॥೭೬॥

೨೫೦

ಹಸಿಯ ಬಿಸಿಲನೆ ಕೊಯ್ದು ಪದಾರ್ಥವ ಮಾಡಿ,
ಉಸಿರ ಎಸರಲ್ಲಿ ಬಾಗುತ್ತಿಪ್ಪರಯ್ಯಾ!
ಇಕ್ಕಲಿಲ್ಲಾರಿಗೆಯು, ಎರೆಯಲಿಲ್ಲಾರಿಗೆಯು
ಭಿಕ್ಷಾವೃತ್ತಿಗಳು ಬಂದು ಬೇಡುತ್ತಿಪ್ಪರಯ್ಯಾ.
ನಿಮ್ಮ ಒಕ್ಕುದ ಮಿಕ್ಕುದ ಉಡಿಯಲ್ಲಿ ಕಟ್ಟಿಕೊಂಡಿಪ್ಪರಯ್ಯಾ.
ಗುಹೇಶ್ವರಾ ನಿಮ್ಮ ಶರಣರು. ॥೭೭॥

೨೫೧

ಸ್ವರದ ಹುಳ್ಳಿಯ ಕೊಂಡು, ಗಿರಿಯ ತಟಾಕಕ್ಕೆ ಹೋಗಿ,
ಹಿರಿಯರು ಓಗರವ ಮಾಡುತ್ತಿಪ್ಪರು.
ಗಿರಿ ಬೇಯದಾಗಿ ಓಗರವಾಗದು.
ಅರ್ಪಿತವಿಲ್ಲಾಗಿ ಪ್ರಸಾದವಿಲ್ಲ ಗುಹೇಶ್ವರಾ. ॥೭೮॥

೨೫೨

ಚಂದ್ರಕಾಂತದ ಗಿರಿಗೆ ಉದಕದ ಸಂಚ,
ಸೂರ್ಯಕಾಂತದ ಗಿರಿಗೆ ಅಗ್ನಿಯ ಸಂಚ,
ಪರುಷದ ಗಿರಿಗೆ ರಸದ ಸಂಚ.
ಬೆರಸುವ ಭೇದವಿನ್ನೆಂತೊ?
ಅಪ್ಪುವನು ಅಗ್ನಿಯನು ಪಕ್ವಕ್ಕೆ ತಂದು
ಅಟ್ಟುಂಬ ಭೇದವನು ಗುಹೇಶ್ವರ ಬಲ್ಲ. ||೭೯||

೨೫೩

ತನು ಹೊರಗಿರಲು, ಪ್ರಸಾದ ಒಳಗಿರಲು
ಏನಯ್ಯಾ ನಿಮ್ಮ ಮನಕ್ಕೆ ಮನ ನಾಚದು?
ಪ್ರಾಣಕ್ಕೆ ಲಿಂಗದಲ್ಲಿ ಪ್ರಸಾದವ ಕೊಂಡಡೆ,
ವ್ರತಕ್ಕೆ ಭಂಗ ಗುಹೇಶ್ವರಾ. ||೮೦||

೨೫೪

ಇಷ್ಟಲಿಂಗಕ್ಕೆ ರೂಪನರ್ಪಿಸಿ ದ್ರವ್ಯಶುದ್ಧವಾಯಿತ್ತೆಂದು
ಪ್ರಾಣಲಿಂಗಕ್ಕೆ ಆರೋಗಣೆಯನಿಕ್ಕುವಾಗ,
ನಿಚ್ಚ[ಕ್ಕೆ] ನಿಚ್ಚ ಕಿಲ್ಬಿಷವೆಂದರಿಯರು.
ಇಷ್ಟಲಿಂಗ ಪ್ರಾಣಲಿಂಗದ, ಆದಿ [ಅಂತುವ] ನಾರೂ ಅರಿಯರು–
ಇದು ಕಾರಣ, ಗುಹೇಶ್ವರಾ ನಿಮ್ಮ ಶರಣರು
ಹಿಂದುಗಾಣದೆ ಮುಂದುಗೆಟ್ಟರು. ||೮೧||

೨೫೫

ಮದ್ದ ನಂಬಿಕೊಂಡಡೆ ರೋಗ ಮಾಣದಿಪ್ಪುದೆ ?
ಸಜ್ಜನಿಕೆಯುಳ್ಳಡೆ ಪ್ರಸಾದಕಾಯ ಕೆಡುವುದೆ ?
ಪ್ರಾಣ, ಲಿಂಗವಾದಡೆ ಪ್ರಾಣ ಬೇರಪ್ಪುದೆ ?
ಪ್ರಾಣಲಿಂಗ ಪ್ರಸಾದವನು ತಿಳಿದು ನೀವು ನೋಡಿರೆ,
ನಾದ ಬಿಂದು ಸೂಸದ ಮುನ್ನ, ಆದಿಯ ಪ್ರಸಾದವ ಭೇದಿಸಿಕೊಂಡರು–
ಗುಹೇಶ್ವರಾ ನಿಮ್ಮ ಶರಣರು. ||೮೨||

೨೫೭

ಖಂಡಾಖಂಡ ಸಂಯೋಗವಿಲ್ಲದ ಅಖಂಡಿತನ ನಿಲವು,
ತನ್ನಲ್ಲಿ ಅಲ್ಲದೆ ಮತ್ತೆಲ್ಲಿಯೂ ಇಲ್ಲ.
ಬಯಲ ಹಿರಿಯರು ಬಯಲನೆ ಅರಸುವರು.
ಅಲ್ಲಿ ಉಂಟೆ ಹೇಳಾ ಗುಹೇಶ್ವರಾ? ॥೮೩॥

೨೫೭

ಅಷ್ಟಾಂಗಯೋಗದಲ್ಲಿ;
ಯಮ ನಿಯಮಾಸನ ಪ್ರಾಣಾಯಾಮ ಪ್ರತ್ಯಾಹಾರ[ವೆಂಬ]
ಧ್ಯಾನ ಧಾರಣ ಸಮಾಧಿ[ಯೆಂಬ], ಎರಡು ಯೋಗ [ವುಂಟು],
ಅಲ್ಲಿ ಅಳಿದು ಕೂಡುವುದೊಂದು ಯೋಗ,
ಅಳಿಯದೆ ಕೂಡುವುದೊಂದು ಯೋಗ.
ಈ ಎರಡು ಯೋಗದೊಳಗೆ,
ಅಳಿಯದೆ ಕೂಡುವ ಯೋಗವು ಅರಿದು ಕಾಣಾ ಗುಹೇಶ್ವರಾ. ॥೮೪॥

೨೫೮

ನಾಭಿಮಂಡಲದ ಉದಯವೆ ಉದಯ.
ಮಧ್ಯನಿರಾಳದ ನಿಲವಿನ ಪರಿಯ ನೋಡಾ !
ಪವನಶೂಲದ ಮೇಲೆ ಪರಿಣಾಮವಯ್ಯಾ.
ಊರ್ಧ್ವ ಮುಖದಲ್ಲಿ ಉದಯವಾಯಿತ್ತ ಕಂಡೆ.
ಮಿಂಚುವ ತಾರಕೆ ಇದೇನೊ ಗುಹೇಶ್ವರಾ. ॥೮೫॥

೨೫೯

ಸ್ವರವೆಂಬ ಕುದುರೆಗೆ ವಿಷ್ಣುವೆಂಬ ಕಡಿವಾಣ,
ಸೂರ್ಯ ಚಂದ್ರರೆಂಬ ಅಂಕಣಿ, ಬ್ರಹ್ಮನೆ ಹಲ್ಲಣ,
ಸುರಾಳವೆಂದಲ್ಲಿ ನಿರಾಳವಾಯಿತ್ತು—ಗುಹೇಶ್ವರನೆಂಬ ರಾವುತಂಗೆ. ॥೮೬॥

೨೬೦

ಸಾಸಿರದೆಂಟನೆಯ ದಳದಲ್ಲಿ ಖೇಚರಿ ಚಲ್ಲಣಗಟ್ಟಿ,
ವಾಸುಗಿಯ ಫಣಾಮಣಿ ಪ್ರಜ್ವಲಿಸುವುದ ಕಂಡೆ.
ಅಸುರರೆಲ್ಲ ತಮತಮಗಂಜಿ ಓಸರಿಸಿ ಮುಂದೆ ನಡೆವಲ್ಲಿ,
ನಾಸಿಕ ಮನವ ಮುಸುಕುವುದ ಕಂಡೆ,

ತಾ ಸುಖಸ್ವರೂಪನಾದ; ಸುಖ ಮುಖಪ್ರವೇಶದಿಂದ!
ಗೋಸಾಸಿರ ನಡೆಗೆಟ್ಟವು ಗುಹೇಶ್ವರಾ, ನಿಮ್ಮುವ ನೆರೆದೆನಾಗಿ. ॥೮೭॥

೨೬೧

ಪಂಚೀಕೃತವೆಂಬ ಪಟ್ಟಣದೊಳಗೆ;
ಈರೈದು ಕೇರಿ, ನಾಲ್ಕೈದು ವೀಥಿ, ಅಲ್ಲಿ ಹಾವ ಕಂಡೆ.
ಹಿಂಡುಗಟ್ಟಿ ಆಡುವ ಮದಗಜವ ಕಂಡೆ!
ಕೇಸರಿಯ ಕಂಡು ಮನ ಬೆದರಿತ್ತು ನೋಡಾ.
ಮೂವರರಸಿಂಗೆ ಇಪ್ಪತ್ತೈದು ಪರಿವಾರ,
ಅಂಜಲಂಜ ಬೆಳಗಾಯಿತ್ತು ಗುಹೇಶ್ವರಾ. ॥೮೮॥

೨೬೨

ಅಪ್ಪುವಿನ ಬಾವಿಗೆ ತುಪ್ಪದ ಘಟ;
ಸಪ್ಪಗೆ, ಸಿಹಿ ಎಂಬ ಎರಡಿಲ್ಲದ ರುಚಿ,
ಪರುಷ ಮುಟ್ಟದ ಹೊನ್ನು!
ಕರೆಸದ ಬೊಜಗನು ಬೆರಸದೆ ಬಸುರಾಯಿತ್ತ, ಕಂಡೆನಾಹಾ!
ಅರುವಿನ ಆಪ್ಯಾಯನ ಮರಹಿನ ಸುಖವೊ!
ಇದು ಕಾರಣ ಮೂರು ಲೋಕವಳಿಯಿತ್ತು ಗುಹೇಶ್ವರಾ. ॥೮೯॥

೨೬೩

ತಪ್ಪಿ ನೋಡಿದಡೆ ಮನದಲ್ಲಿ ಅಚ್ಚೊತ್ತಿದಂತಿತ್ತು .
ಇಪ್ಪೆಡೆಯ ವಿಚಾರಿಸಿ ನೋಡಿದಡೆ ಇಲ್ಲದಂತಾಯಿತ್ತು,
ಲೆಪ್ಪದ ಜಲದ ಪಾದಘಾತದಂತೆ.
ಕರ್ತೃತ್ವವೆಲ್ಲಿಯದೊ ಗುಹೇಶ್ವರಾ. ॥೯೦॥

೨೬೪

ನಿರಾಳವೆಂಬ ಕೂಸಿಂಗೆ ಬೆಣ್ಣೆಯನಿಕ್ಕಿ, ಹೆಸರಿಟ್ಟು ಕರೆದವರಾರೊ ?
ಅಕಟಕಟಾ ಶಬ್ದದ ಲಜ್ಜೆ[ಯ] ನೋಡಾ !
ಗುಹೇಶ್ವರನರಿಯದ ಅನುಭಾವಿಗಳೆಲ್ಲರ
ತರಕಟ ಕಾಡಿತ್ತು. ॥೯೧॥

೨೬೫

ಕಿಚ್ಚಿನ ಕೆಂಡದಂತೆ ಹೊರೆಯಲ್ಲಿಪ್ಪೆಯಯ್ಯಾ,
ಬೆಂಕಿಯ ಬೆಳಗ ಕಂಡೆ— ಇದು ಕಾರಣ,
ನಿಮ್ಮ ಕಂಡೆ ಪರಮಜ್ಞಾನಿ ಗುಹೇಶ್ವರಾ. ॥೯೨॥

೨೬೬

ಧಾತು ಮಾತು ಪಲ್ಲಟಿಸಿದರೆ, ಗಮನವಿನ್ನೆಲ್ಲಿಯದೊ?
ಧ್ಯಾನ ಮೌನವೆಂಬುದು ತನುಗುಣ ಸಂದೇಹವಯ್ಯಾ.
ಸುಜ್ಞಾನಭರಿತ, ಅನುಪಮಸುಖಿ— ಗುಹೇಶ್ವರಾ ನಿಮ್ಮ ಶರಣನು. ॥೯೩॥

೨೬೭

ಪೃಥ್ವಿ ಅಪ್ಪು ತೇಜ ವಾಯು ಆಕಾಶದ ಕೊನೆಯ ಮೊನೆಯ ಮೇಲೆ,
ಇಪ್ಪತ್ತೈದು ಗ್ರಾಮಂಗಳು, ಚೌಷಷ್ಟಿ ಪಟ್ಟಣ.
ಛಪ್ಪನ್ನ ವೀಥಿಗಳ ದಾಂಟಿ, ಛತ್ತೀಸ ಪುರದ ರಚನೆಯ ನೋಡಬಲ್ಲೆವೆಂಬರು,
ತ್ರಿಕೋಣದ್ವಾರಮಂಟಪದ ಅಯ್ವತ್ತೆರಡಕ್ಷರದ,
ಶಾಸನದ ಲಿಪಿಯಂ ತಿಳಿಯಲೋದಿ,
ಎಂಬತ್ತುನಾಲ್ಕುಲಕ್ಷ ದ್ವಾರದೊಳಗೆ ಹೊಕ್ಕು ಹೊರವಡುವ ಜೀವನ ತಿಳಿಯಲರಿಯದೆ
ದಕ್ಷಿಣದ್ವಾರದಿಂದ ಉತ್ತರದ್ವಾರಕ್ಕೆ ಬಂದು,
ಪಶ್ಚಿಮವಾಯುವ ಕೊನೆಯ ಮೊನೆಯ ಮೇಲೆ ಬೆಳಗುವ ಜ್ಯೋತಿಯ
ನಿಮ್ಮ ಶರಣರಲ್ಲದೆ, ಲೋಕದ ಅಜ್ಞಾನಿಗಳೆತ್ತ ಬಲ್ಲರು ಗುಹೇಶ್ವರಾ ? ॥೯೪॥

೨೬೮

ಅಗ್ನಿ ಮುಟ್ಟಲು ತೃಣ, ಭಸ್ಮವಾದುದನೆಲ್ಲರೂ ಬಲ್ಲರು.
ತೃಣದೊಳಗೆ ಅಗ್ನಿಯುಂಟೆಂಬುದ ತಿಳಿದು ನೋಡಿರೆ.
ಅಗ್ನಿ ಜಲವ ನುಂಗಿತ್ತು, ಜಲ ಅಗ್ನಿಯ ನುಂಗಿತ್ತು.
ಪೃಥ್ವಿ ಎಲ್ಲವ ನುಂಗಿತ್ತು, ಆಕಾಶವನೆಯ್ದೆ ನುಂಗಿತ್ತು.
ಅರಿದೆನೆಂಬ ಜಡರುಗಳು ನೀವು ತಿಳಿದು ನೋಡಿರೆ—
ತಿಳಿಯಬಲ್ಲಡೆ ಗುಹೇಶ್ವರನ ನಿಲವು ತಾನೆ ! ॥೯೫॥

೨೬೯

ವೇದ ಪ್ರಮಾಣವಲ್ಲ, ಶಾಸ್ತ್ರ ಪ್ರಮಾಣವಲ್ಲ
ಶಬ್ದ ಪ್ರಮಾಣವಲ್ಲ ಕಾಣಾ ಭೋ ಲಿಂಗಕ್ಕೆ !

ಅಂಗಸಂಗದ ಮಧ್ಯದಲ್ಲಿಟ್ಟು ಬೈಚಿಟ್ಟು ಬಳಸಿದ
ಗುಹೇಶ್ವರಾ ನಿಮ್ಮ ಶರಣ. ||೯೬||

೨೭೦

ಅಗ್ನಿ ಮುಟ್ಟಿದುದುವೊ, ಆಕಾಶದಲದೆವೊ
ಉದಕ ಮುಟ್ಟಿದುದುವೊ, ನಿರಾಳದಲದೆವೊ
ಬ್ರಹ್ಮರಂಧ್ರದಲದೆವೊ – ಭ್ರಮಿಸದೆ ನೋಡಾ !
ಆವಂಗೆಯೂ ಅಸದಳ, ಆವಂಗೆಯೂ ಅರಿಯಬಾರದು!
ಇದೇನು ಮಾಯೆ ಹೇಳಾ ಗುಹೇಶ್ವರಾ ? ||೯೭||

೨೭೧

ಗ್ರಾಮಮಧ್ಯದ ಮೇಲಣ ಮಾಮರ,
ಸೋಮಸೂರ್ಯರ ನುಂಗಿತ್ತಲ್ಲಾ!
ಅಮರಗಣಂಗಳ ನೇಮದ ಮಂತ್ರ,
ಬ್ರಹ್ಮಾಂಡಕೋಟಿಯ ಮೀರಿತ್ತಲ್ಲಾ!
ಸುಮನ ಸುಜ್ಞಾನದೊಳಗಾಡುವ ಮಹಾಮಹಿಮಂಗೆ,
ನಿರ್ಮಳವಾಯಿತ್ತು – ಗುಹೇಶ್ವರಾ. ||೯೮||

೨೭೨

ಪಂಚಬ್ರಹ್ಮಮೂರ್ತಿ ಪ್ರಣವ ಮಂತ್ರರೂಪ
ಪಂಚಮುಖ ದಶಭುಜ ಫಣಿಯ ಮಣಿಯ ಮೇಲೆ ನೋಡುತ್ತೈದಾನೆ !
ಸಮತೆ ಸಮಾಧಿಯೆಂಬ ಸಮರಸದೊಳಗೆ;
ಚಂದ್ರಕಾಂತಕೊಡದಲ್ಲಿ ಅಮೃತವ ತುಂಬಿ,
ಕೊಡನೊಡೆಯದೆ ಬೆಳಗುತ್ತಿದೆ, ಗುಹೇಶ್ವರಾ. ||೯೯||

೨೭೩

ಕಂಗಳ ಬೆಳಗ ಕಲ್ಪಿಸಬಾರದು, ಕರ್ಣದ ನಾದವ ವರ್ಣಿಸಬಾರದು.
ಜಿಹ್ವೆಯ ರುಚಿಗೆ ಪ್ರತಿಯಿಲ್ಲವೆಂದಿತ್ತು.
ಮತಿಗೆ ಮಹಾಘನವಪ್ಪ ಸುಷುಮ್ನನಾಳದ ಸುಯಿಧಾನವ,
ಪ್ರಮಾಣಿಸಬಾರದು,
ಅಣು ರೇಣು ತೃಣ ಕಾಷ್ಠದೊಳಗೆ ಭರಿತ ಮನೋಹರ,
ನಿಂದ ನಿರಾಳ – ಗುಹೇಶ್ವರಾ. ||೧೦೦||

೨೭೪

ಸ್ಥೂಲ ಸೂಕ್ಷ್ಮದೊಳಗೆ ಬೆಳಗುವ,
ಮಹಾಬೆಳಗಾಗಿ ಹೊಳೆವ,– ಜ್ಞಾನಜ್ಯೋತಿ ದಳಗಳನೆಲ್ಲವ ಮೀರಿ,
ನೆಳಲನುಂಗಿದ ಬಿಸಿಲೊಳಗೆ ಚಂದ್ರಮನುದಯ.
ಜಲಧಿವಳಯದ ಬೆಳಸ ಹೇಳಲು ಆರ ಅಳವಲ್ಲ.
ಆಳು ಆಳ್ದನ ನುಂಗಿ ಈರೇಳು ಭುವನವ ದಾಂಟಿ
ಗುಹೇಶ್ವರ ನಿಂದ ನಿಲವು ಹೊರಗು ಒಳಗನೆ ನುಂಗಿತ್ತು. ॥೧೦೧॥

೨೭೫

ಪ್ರಾಣಲಿಂಗ ಪರಾಪರವೆಂದರಿದು,
ಅಣು ರೇಣು ತೃಣ ಕಾಷ್ಠದಲ್ಲಿ ಕೂಡಿ ಪರಿಪೂರ್ಣಶಿವನೆಂದರಿದು,
ಇಂತು–ಕ್ಷಣವೇದಿ ಅಂತರಂಗವ ವೇಧಿಸಲ್ಕೆ
ಅಗಣಿತ ಅಕ್ಷೇಶ್ವರ ತಾನೆಂದರಿದು
ಪ್ರಣವಪ್ರಭೆಯ ಮೇಲಣ ಪರಂಜ್ಯೋತಿ ತಾನೆಂದರಿದ ಕಾರಣ,
ಗುಹೇಶ್ವರಾ ನಿಮ್ಮ ಶರಣನುಪಮಾತೀತನು. ॥೧೦೨॥

೨೭೬

ನಾರಿ ಹರಿಯಿತ್ತು ಬಿಲ್ಲು ಮುರಿಯಿತ್ತು,
ಅಂಬು ಏನ ಮಾಡುವುದು?
ಎಲೆ ಎಲೆ ನೋಡಿರಣ್ಣಾ, ಹೊತ್ತು ಹೋಯಿತ್ತು ನೇಮ ನೀರಡಿಸಿತ್ತು
ಏನು ಕಾರಣ ಹೇಳಾ ಗುಹೇಶ್ವರಾ ? ॥೧೦೩॥

೨೭೭

ಆಕಾಶವ ಕಪ್ಪೆ ನುಂಗಿದಡೆ ಆಗಳೆ ಹತ್ತಿತ್ತು ರಾಹು!
ನೋಡಿರೆ; ಅಪೂರ್ವ ಅತಿಶಯವ!
ಅಂಧಕ ಹಾವ ಹಿಡಿದ.–
ಇದು ಕಾರಣ; ಲೋಕಕ್ಕೆ ಅರುಹದೆ,
ನಾನು ಅರಿದೆನು ಗುಹೇಶ್ವರಾ. ॥೧೦೪॥

೨೭೮

ನೀರ ಸುಟ್ಟ ಕಿಚ್ಚಿನ ಬೂದಿಯ ಮರ್ಮವ ಬಲ್ಲಡೆ,
ನೀವು ಹೇಳಿರೆ?

ಬಯಲ ಸುಟ್ಟ ಕಿಚ್ಚಿನ ಬೂದಿಯ ಕಂಡಡೆ,
ನೀವು ಹೇಳಿರೆ?
ವಾಯುನಿಂದ ಸ್ಥಾನಕ್ಕೆ (ವ?), ಗುಹೇಶ್ವರ ನಿಂದ ನಿಲವ ಕಂಡಡೆ,
ನೀವು ಹೇಳಿರೆ? ॥೧೦೫॥

೨೭೯

ಬಂದೂ ಬಾರದು ಹೊಂದಿಯೂ ಹೊಂದದು,
ನಿಂದೂ ನಿಲ್ಲದ ಪರಿಯ ನೋಡಾ !
ಬಿಂದು ನಾದವ ನುಂಗಿತ್ತು, ಮತ್ತೊಂದಧಿಕವುಂಟೆ?
ನವಖಂಡ ಪೃಥ್ವಿಯನೊಳಕೊಂಡ ಅಗಮ್ಯ ಸನ್ಮತ ಸುಖವಿರಲು
ಗುಹೇಶ್ವರನ ಬೇರೆ ಅರಿಯ(ಅರಸ?)ಲುಂಟೆ? ॥೧೦೬॥

೨೮೦

ನೆನಹು ನೆನೆವ ಮನದಲ್ಲಿಲ್ಲ, ತನುವಿನಾಶೆ ಮುನ್ನವಿಲ್ಲ.
ಮನ ಮನವನೊಳಕೊಂಡ ಘನಘನವನೇನೆಂಬೆ !
ತನ್ನಲ್ಲಿ ತಾನೆಯಾಯಿತ್ತು !
ನೆನೆಯಲಿಲ್ಲದ ನಿಂದ ನಿರಾಳ ಅನಾಗತವಾದುದ ಕಂಡು
ನಾನು ಬೆರಗಾದೆನು.
ಅಂತು ಇಂತು ಎನಲಿಲ್ಲ, ಚಿಂತೆಯಿಲ್ಲದ ಮಹಾಘನವ.
ಗುಹೇಶ್ವರಲಿಂಗವ ಬೇರೆ ಅರಸಲಿಲ್ಲ. ॥೧೦೭॥

೨೮೧

ಆಯತವಾಯಿತ್ತು ಅನುಭಾವ, ಸ್ವಾಯತವಾಯಿತ್ತು ಶಿವಜ್ಞಾನ,
ಸಮಾಧಾನವಾಯಿತ್ತು ಸದಾಚಾರ.–
ಇಂತೀ ತ್ರಿವಿಧವು ಏಕಾರ್ಥವಾಗಿ,
ಅರುಹಿನ ಹೃದಯ ಕಂದೆರೆದು,
ಅನಂತಲೋಕಾಲೋಕದ ಅಸಂಖ್ಯಾತ ಮಹಾಗಣಂಗಳೆಲ್ಲರು
ಲಿಂಗಭಾವದಲ್ಲಿ ಭರಿತರಾಗಿ, ಗಗನಸಿದ್ಧಾಂತದಿಂದ ಉಪದೇಶಕ್ಕೆ ಬಂದು
ಭಕ್ತಿರಾಜ್ಯವನೆ ಹೊಕ್ಕು, ನಿಜಲಿಂಗಸುಕ್ಷೇತ್ರವನೆ ಕಂಡು,
ಅಮೃತಸರೋವರದೊಳಗಣ ವಿವೇಕವೃಕ್ಷ ಪಲ್ಲವಿಸಲು
ವಿರಕ್ತಿಯೆಂಬ ಪುಷ್ಪ ವಿಕಸಿತವಾಗಲು,
ಪರಮಾನಂದವೆಂಬ ಮಠದೊಳಗೆ, ಪರಿಣಾಮ ಪಶ್ಚಿಮಜ್ಯೋತಿಯ ಬೆಳಗಿನಲ್ಲಿ

ಪರುಷದ ಸಿಂಹಾಸನವನಿಕ್ಕಿ ಪ್ರಾಣಲಿಂಗ ಮೂರ್ತಿಗೊಂಡಿರಲು,
ದಕ್ಷಿಣವ ದಾಂಟಿ ಉತ್ತರಾಬ್ಧಿಯಲ್ಲಿ ನಿಂದು
ಅಖಂಡ ಪರಿಪೂರ್ಣಪೂಜೆಯ ಮಾಡುವವರಿಗೆ
ನಮೋನಮೋ ಎಂಬೆ ಗುಹೇಶ್ವರಾ. ||೧೦೮||

೨೮೨

ಸ್ವಸ್ಥಾನ ಸ್ವ(ಸು?)ಸ್ಥಿರದ ಸುಮನಮಂಟಪದೊಳಗೆ,
ನಿತ್ಯನಿರಂಜನ ಪ್ರಭೆಯೊಳಗೆ, ಶಿವಯೋಗದನುಭಾವವೇಕಾರ್ಥವಾಗಿ,
ಗುಹೇಶ್ವರಾ ನಿಮ್ಮ ಶರಣನನುಪಮಸುಖಿಯಾಗಿರ್ದನು. ||೧೦೯||

೨೮೩

ಆಧಾರದಲ್ಲಿ ಅಭವನು ಸ್ವಾಯತ,
ಸ್ವಾದಿಷ್ಠಾನದಲ್ಲಿ ರುದ್ರನು ಸ್ವಾಯತ,
ಮಣಿಪೂರಕದಲ್ಲಿ ಮೃಡನು ಸ್ವಾಯತ,
ವಿಶುದ್ಧಿಯಲ್ಲಿ ಸದಾಶಿವನು ಸ್ವಾಯತ.
ಆಜ್ಞಾಚಕ್ರದಲ್ಲಿ ಶಾಂತ್ಯಾತೀತನು ಸ್ವಾಯತ.
ಗುಹೇಶ್ವರಲಿಂಗವು, ವ್ಯೋಮ ವ್ಯೋಮವ ಕೂಡಿದಂತೆ ! ||೧೧೦||

೨೮೪

ಆಡು ಮಂದರಗಿರಿಯ ಕೋಡು ಬ್ರಹ್ಮಶಿಖಿಯ,
ಬೇಡಿತ್ತನೀವ ವರದಾನಿಯನೇನೆಂಬೆನು?
ಆಡುತ್ತಾಡುತ್ತ ಅನಲನುರಿದು ಎರಡೊಂದಾದ ಪರಿಯ ನೋಡಾ!
ನೋಡುತ್ತ ನೋಡುತ್ತ ಅನಲನಲ್ಲಿಯೆ ಅರತು ಕೂಡಿದ,
ಮಹಾಘನವನೇನೆಂಬೆನು ಗುಹೇಶ್ವರಾ ? ||೧೧೧||

೨೮೫

ಧರೆಯ ಮೇಲುಳ್ಳ ಅರುಹಿರಿಯರೆಲ್ಲರು ನೆರಹಿ
ಪರಿಯಾಯಪರೀಕ್ಷೆಯನೊರೆದು, ಬಣ್ಣವ ನೋಡಿ,
ಸರೋವರದ ಪುಷ್ಪದೊಳು ಭರಿತ ಪರಿಮಳ ತುಂಬಿ,
ಪರಮಜ್ಞಾನ ಜ್ಯೋತಿ ಪರಬ್ರಹ್ಮವನು ಮೀರಿ
ಪುರುಷರತ್ನದೊಳಡಗಿ, ಗುಹೇಶ್ವರ ನಿಂದ ನಿಲುವು–
ಮೇರು ಗಗನವ ನುಂಗಿತ್ತು. ||೧೧೨||

೨೮೬

ತಾಳಮರದ ಮೇಲೊಂದು ಬಾವಿ ಇದ್ದಿತ್ತಲ್ಲಾ.
ಆ ಬಾವಿಯ ತಡಿಯ ಹುಲ್ಲನು, ಒಂದು ಮೊಲ ಬಂದು ಮೇಯಿತ್ತಲ್ಲಾ!
ಕಾಯಸಹಿತಜೀವನ ಬಾಣಸ ಮಾಡಲರಿಯರು
ಗುಹೇಶ್ವರಾ–ನಿಮ್ಮಾಣೆ. ||೧೧೩||

೨೮೭

ಏಳು ತಾಳ[ದ] ಮೇಲೆ ಕೇಳುವ ಸುನಾದ,
ಸ್ಥೂಲ ಸೂಕ್ಷ್ಮ ಕೈಲಾಸದ ರಭಸ,
ಗಂಗೆವಾಳುಕಸಮಾರುದ್ರರ ತಿಂಥಿಣಿ,
ಗಗನಗಂಭೀರದ ಶಿವಸ್ತುತಿಯ ನೋಡ[ಲೊಡನೆ]
ಪಿಂಡ ಬ್ರಹ್ಮಾಂಡವಾಯಿತ್ತು–
ಅಖಂಡ ನಿರಾಳ ಗುಹೇಶ್ವರಾ. ||೧೧೪||

೨೮೮

ವಾಮಭಾಗದಲೊಂದು ಶಿಶು ಹುಟ್ಟಿತ್ತ ಕಂಡೆ.
'ಜೋ ಜೋ' ಎಂದು ಜೋಗುಳವಾಡಿತ್ತ ಕಂಡೆ.
ಜೋಗುಳವಾಡಿದ ಶಿಶು ಅಲ್ಲಿಯೆ ಲಯವಾಯಿತ್ತು (ಬಯಲಾಯಿತ್ತು ?),
ಗುಹೇಶ್ವರನೆಂಬ ಶಬ್ದ ಅಲ್ಲಿಯೆ ಲಯವಾಯಿತ್ತು ! ||೧೧೫||

೨೮೯

ಬ್ರಹ್ಮ ವಿಷ್ಣುವ ನುಂಗಿ, ವಿಷ್ಣು ಬ್ರಹ್ಮನ ನುಂಗಿ,
ಬ್ರಹ್ಮಾಂಡದೊಳಡಗಿ, ಶತಪತ್ರ ಸಹಸ್ರದಳಂಗಳ ಮೀರಿ
ಚಿತ್ರಗುಪ್ತರ ಕೈಯ ಪತ್ರವ ನಿಲಿಸಿತ್ತು
ಗುಹೇಶ್ವರನೆಂಬ ಲಿಂಗೈಕ್ಯ[ದ ನಿಲ]ವು. ||೧೧೬||

೨೯೦

ಈರೈದು ತಲೆಯನರಿದು, ಧಾರೆವಟ್ಟಲನಿಕ್ಕಿ,
ಧಾರುಣಿಯ ಮೇಲೆ ತಂದಿರಿಸಿದವರಾರೊ ?
ಸೋಮ ಸೂರ್ಯರ ಹಿಡಿದೆಳೆತಂದು,

ವಾರಿಧಿಯ ತಡೆಯಲ್ಲಿ ಓಲೆಗಳೆದವರಾರೊ ?
ಊರಿಲ್ಲದ ಊರಿನಲ್ಲಿ [ಹೆ]ಮ್ಮಾರಿ ಹೊಕ್ಕುದ ಕಂಡು
ಆರೈಯ ಹೋಗಿ [ನೀ] ನಾನಿಲ್ಲ ಗುಹೇಶ್ವರಾ: ॥೧೧೭॥

೨೯೧

ಅನಾದಿಯ ಭ್ರೂಮಧ್ಯದಲ್ಲಿ, ಐದು ಕುದುರೆಯ ಕಟ್ಟಿದ ಕಂಬ, ಮುರಿಯಿತ್ತು !
ಎಂಟಾನೆ ಬಿಟ್ಟೋಡಿದವು !
ಹದಿನಾರು ಪ್ರಜೆ ಬೊಬ್ಬಿಡುತಿರ್ದರು.
ಶತಪತ್ರಕಮಲಕರ್ಣಿಕೆಯ ಮಧ್ಯದಲ್ಲಿ
ಗುಹೇಶ್ವರಲಿಂಗ ಶಬ್ದ ಮುಗ್ಧವಾಗಿರ್ದನು. ॥೧೧೮॥

೨೯೨

ಉದಕದೊಳಗೆ ಕಿಚ್ಚು ಹುಟ್ಟಿ ಸುಡುತಿರ್ದುದ ಕಂಡೆ,
ಗಗನದ ಮೇಲೆ ಮಾಮರನ ಕಂಡೆ,
ಪಕ್ಕವಿಲ್ಲದ ಹಕ್ಕಿ ಬಯಲ ನುಂಗಿತ್ತ [ಕಂಡೆ] ಗುಹೇಶ್ವರಾ. ॥೧೧೯॥

೨೯೩

ಮೃಗದ ಸಂಚದ ತಲೆಯಲ್ಲಿ ಜಗದ ಬಯಲ ನಾಲಗೆ!
ಅಘಹರನ ದೃಷ್ಟಿಯಲ್ಲಿ ಬೊಬ್ಬೆಯಬ್ಬರವಿದೇನೊ?
ಗಗನದ ವಾಯುವ ಬೆಂಬಳಿವಿಡಿದು,
ಅಗ್ನಿಯಪ್ಪಿನ ಕಳೆಯಲ್ಲಿ ಮೇದಿನಿ ಅಡಗಿತ್ತು, ನೋಡಾ!
ಮನದ ಬಗೆಯನವಗ್ರಹಿಸಿ, ಜಗದ ಬಣ್ಣವ ನುಂಗಿ,
ಗುಹೇಶ್ವರನೆಂಬ ಲಿಂಗದಲ್ಲಿ ನಿರಾಳವಾಯಿತ್ತು. ॥೧೨೦॥

೨೯೪

ಸುಳಿವ ಸುತ್ತುವ ಮನದ ವ್ಯವಹರಣೆಯುಳ್ಳನ್ನಕ್ಕರ,
ಅರಿಯೆನರಿಯೆ ನೆರೆ ಶಿವಪಥವ
ಗುಹೇಶ್ವರಲಿಂಗದ ನಿಜವನರಿದ ಬಳಿಕ
ಅರಿಯೆನರಿಯೆ ಲೋಕದ ಬಳಕೆಯ. ॥೧೨೧॥

೨೯೫

ಮನದ ಕಾಲತ್ತಲು ತನುವಿನ ಕಾಲಿತ್ತಲು.
ಅನುಭಾವದ ಅನುವನು ನೆನೆವುತ್ತ, ನೆನೆವುತ್ತ, ಗಮನ ಕೆಟ್ಟಿತ್ತು.

ಲಿಂಗ ಮುಖದಲಾದ ಸೂಚನೆಯ ಸುಖವ ಕಂಡು ಗಮನ ಕೆಟ್ಟಿತ್ತು.
ಅನುವಾಯಿತ್ತು ಅನುವಾಯಿತ್ತು, ಅಲ್ಲಿಯೆ ತಲ್ಲೀನವಾಯಿತ್ತು –
ಗುಹೇಶ್ವರನೆಂಬ ಲಿಂಗೈಕ್ಯಂಗೆ ! ||೧೨೨||

೨೯೬

ಪರಿಮಳವಿದ್ದು ಗಮನಾಗಮನವಿಲ್ಲವಿದೇನೊ!
ಬಯಲ ಸಿಡಿಲು ಹೊಯ್ದಡೆ
ಹಿಂದಕ್ಕೆ (ಹಿಂದೆ?) ಹೆಣನ ಸುಡುವರಿಲ್ಲ ಗುಹೇಶ್ವರಾ. ||೧೨೩||

೨೯೭

ಬೇರಿಲ್ಲದ ಗಿಡುವಿಂಗೆ ಪರಿಮಳವಿಲ್ಲದ ಪುಷ್ಪ ಹುಟ್ಟಿ,
ರೂಹಿಲ್ಲದ ಅನಲನು ಅವಗ್ರಹಿಸಿತ್ತು ನೋಡಾ !
ವೃಕ್ಷವಿಲ್ಲದ ದಳದಲ್ಲಿ ಒಂದು ಪಕ್ಷಿ ಹುಟ್ಟಿತ್ತು ನೋಡಾ !
ಅತ್ತಲಿತ್ತಲು ಕಾಣದೆ ನೆತ್ತಿಯ ನಯನದಲ್ಲಿ ನೋಡಿತ್ತಲ್ಲಾ !
ನಿತ್ಯಾನಂದಪರಿಪೂರ್ಣದ ನಿಲವಿನ,
ಅಮೃತಬಿಂದುವಿನ ರಸವ ದಣಿಯುಂಡು,
ಪಶ್ಚಿಮದಲ್ಲಿ ಗುಹೇಶ್ವರಲಿಂಗವ ಸ್ವೀಕರಿಸಿತ್ತಲ್ಲಾ. ||೧೨೪||

೨೯೮

ನೆನಹು ಸತ್ತಿತ್ತು ಭ್ರಾಂತು ಬೆಂದಿತ್ತು.
ಅರಿವು ಮರೆಯಿತ್ತು ಕುರುಹುಗೆಟ್ಟಿತ್ತು.
ಗತಿಯನರಸಲುಂಟೆ? ಮತಿಯನರಸಲುಂಟೆ?
ಅಂಗವೆಲ್ಲ ನಷ್ಟವಾಗಿ ಲಿಂಗಲೀಯವಾಯಿತ್ತು.
ಕಂಗಳಂಗದ ಕಳೆಯ ಬೆಳಗಿನ ಭಂಗ ಹಿಂಗಿತ್ತು ಗುಹೇಶ್ವರಾ. ||೧೨೫||

೨೯೯

ಬೆಕ್ಕ ನುಂಗಿದ ಕೋಳಿ ಸತ್ತು ಕೂಗಿತ್ತ ಕಂಡೆ.
ಕರಿಯ ಕೋಗಿಲೆ ಬಂದು ರವಿಯ ನುಂಗಿತ್ತ ಕಂಡೆ.
(ಕರಿಯ ಕೋಗಿಲೆಯ ರವಿ ಬಂದು ನುಂಗಿತ್ತ ಕಂಡೆ ?).
ಸೆಜ್ಜೆ ಬೆಂದು ಶಿವದಾರ ಉಳಿಯಿತ್ತು.
ಪ್ರಾಣಲಿಂಗವೆಂಬ ಶಬ್ದ ವ್ರತಗೇಡಿಯಾಯಿತ್ತು

ನೀರ ಮೇಲಣ ಹೆಜ್ಜೆಯನಾರು ಬಲ್ಲವರಿಲ್ಲ.
ಗುಹೇಶ್ವರನೆಂಬ ಶಬ್ದ ಅಲ್ಲಿಯೂ ಇಲ್ಲ, ಇಲ್ಲಿಯೂ ಇಲ್ಲ. ॥೧೨೬॥

೩೦೦

ಅರಿವಿನ ಕುರುಹಿಂದೇನೊ ಒಳಗೆ ಅನು(ನಿ?)ಮಿಷ ನಂದಿನಾಥನಿರಲು ?
ಪೂಜಿಸುವ ಭಕ್ತನಾರೊ? ಪೂಜೆಗೊಂಬ ದೇವನಾರೊ ?
ಮುಂದು ಹಿಂದು, ಹಿಂದು ಮುಂದಾಡದೆ,
ಗುಹೇಶ್ವರ ನೀನು ನಾನು, ನಾನು ನೀನಾದೊಡೆ ? ॥೧೨೭॥

೩೦೧

ಪೂರಾಯ ಗಾಯ ತಾಗಿ ನೊಂದೆನೆಂದರಿಯೆನಯ್ಯಾ,
ಇದ್ದೆನೆಂದರಿಯೆನಯ್ಯಾ, ಸತ್ತೆನೆಂದರಿಯೆನಯ್ಯಾ,
ಕಾಯ ಪಲ್ಲಟವಾಯಿತ್ತು ಗುಹೇಶ್ವರಲಿಂಗ ಸ್ವಾಯತವಾಗಿ. ॥೧೨೮॥

೩೦೨

ಪಿಂಡಮುಕ್ತನ ಪದಮುಕ್ತನ ರೂಪಮುಕ್ತನ – ತಿಳಿದೆ ನೋಡಾ.
ಪಿಂಡವೆ ಕುಂಡಲಿಯ ಶಕ್ತಿ, ಪದವೆ ಹಂಸನ ಚರಿತ್ರ,
ಬಿಂದು ಅನಾಹತವೆಂದರಿದು – ಗುಹೇಶ್ವರಲಿಂಗವ ಕೂಡಿದೆನು. ॥೧೨೯॥

೩೦೩

ಅಂಗವಿಲ್ಲಾಗಿ ಅನ್ಯಸಂಗವಿಲ್ಲ, ಅನ್ಯಸಂಗವಿಲ್ಲಾಗಿ ಮತ್ತೊಂದ ವಿವರಿಸಲಿಲ್ಲ.
ಮತ್ತೊಂದ ವಿವರಿಸಲಿಲ್ಲಾಗಿ ನಿಸ್ಸಂಗವಾಯಿತ್ತಯ್ಯಾ.
ಗುಹೇಶ್ವರಾ ನಿಮ್ಮ ನಾಮವಿಂತುಟಯ್ಯಾ. ॥೧೩೦॥

೩೦೪

ನೆನೆ ಎಂದಡೆ ಏನ ನೆನೆವೆನಯ್ಯಾ?
ಎನ್ನ ಕಾಯವೆ ಕೈಲಾಸವಾಯಿತ್ತು,
ಮನವೆ ಲಿಂಗವಾಯಿತ್ತು, ತನುವೆ ಸೆಜ್ಜೆಯಾಯಿತ್ತು.
ನೆನೆವಡೆ ದೇವನುಂಟೆ? ನೋಡುವಡೆ ಭಕ್ತನುಂಟೆ?
ಗುಹೇಶ್ವರಲಿಂಗ ಲೀಯವಾಯಿತ್ತು. ॥೧೩೧॥

೩೦೫

ಅನು ನೀನೆಂಬುದು ತಾನಿಲ್ಲ, ತಾನರಿದ ಬಳಿಕ ಏನೂ ಇಲ್ಲ ಇಲ್ಲ.
ಇಲ್ಲದ ಇಲ್ಲವೆ ಎಲ್ಲಿಂದ ಬಪ್ಪುದೊ?
ಅನುವರಿದು, ತನುವ ಮರೆದ ಭಾವರಹಿತ ಗುಹೇಶ್ವರ. ||೧೩೨||

೩೦೬

ಗಿಡುವಿನ ಮೇಲಣ ತುಂಬಿ ಕೂಡೆ ವಿಕಸಿತವಾಯಿತ್ತು,
ತುಂಬಿ ನೋಡಾ !
ಆತುಮ ತುಂಬಿ ತುಂಬಿ ಪರಮಾತುಮ ತುಂಬಿ ತುಂಬಿ ನೋಡಾ!
ಗುಹೇಶ್ವರನೆಂಬ ಲಿಂಗಕ್ಕೆ ಎರಗಿ ನಿಬ್ಬೆರಗಾಯಿತ್ತು
ತುಂಬಿ ನೋಡಾ ! ||೧೩೩||

೩೦೭

ಅಂತರಂಗ ಸನ್ನಹಿತ, ಬಹಿರಂಗ ನಿಶ್ಚಿಂತವೊ ಅಯ್ಯಾ.
ತನು ತನ್ನ ಸುಖ, ಮನ ಪರಮ ಸುಖವೊ,
ಅದು ಕಾರಣ ಕಾಯ ವಾಯವೊ, ಗುಹೇಶ್ವರ ನಿರಾಳವೊ ಅಯ್ಯಾ. ||೧೩೪||

೩೦೮

ಅಂಗದ ಮೇಲೆ ಲಿಂಗವರತು, ಲಿಂಗದ ಮೇಲೆ ಅಂಗವರತು
ಭಾವತುಂಬಿ ಪರಿಣಾಮವರತು,
ನಾಮವಿಲ್ಲದ ದೇವರಿಗೆ ನೇಮವೆಲ್ಲಿಯದೊ ಗುಹೇಶ್ವರಾ. ||೧೩೫||

೩೦೯

ಆದಿ ಅನಾದಿ ಒಂದಾದಂದು, ಚಂದ್ರಸೂರ್ಯರೊಂದಾದಂದು,
ಧರೆ ಆಕಾಶ ಒಂದಾದಂದು;
ಗುಹೇಶ್ವರಲಿಂಗನು ನಿರಾಳನು. ||೧೩೬||

೩೧೦

ಅಂಗದ ಮೇಲೆ ಲಿಂಗ, ಲಿಂಗದ ಮೇಲೆ ಅಂಗವಿದೇನೊ ?
ಮನದ ಮೇಲೆ ಅರಿವು, ಅರಿವಿನ ಮೇಲೆ ಕುರುಹು ಇದೇನೊ ?

ನೀನೆಂಬಲ್ಲಿ ನಾನು, ನಾನೆಂಬಲ್ಲಿ ನೀನು.
'ನೀ' 'ನಾ' ಎಂಬುದೆ? – ತೆರಹಿಲ್ಲ ಗುಹೇಶ್ವರಾ. ||೧೩೭||

**ಸೂತ್ರ:** ಇಂತು ಪ್ರಾಣಲಿಂಗಿಯ ಸ್ಥಲದಲ್ಲಿ ಅನುಭವ ಮುಖದಿಂದ ಆಚರಿಸಿ ಐಕ್ಯವಾದ ಪ್ರಾಣಲಿಂಗಿ ಮುಂದೆ ಜ್ಞಾನಮುಖದಿಂದ ಆಚರಿಸಿ ಬೆರಸುವ ಭೇದವೆಂತಿರ್ದುದೆಂದೆಡೆ– ಮುಂದೆ ಶರಣಸ್ಥಲವಾದುದು.



೩೧೧

ವಿರಹದಲುತ್ಪತ್ಯವಾದವರ, ಮಾಯದ ಬೇಳುವೆ ಹತ್ತಿತ್ತಲ್ಲಾ !
ಸ್ವರೂಪ ನಿರೂಪವೆಂದರಿಯರು,
ಹೆಸರಿಟ್ಟು ಕರೆವ ಕಷ್ಟವ ನೋಡಾ ಗುಹೇಶ್ವರಾ. ॥೧॥

೩೧೨

ಹಿಂದನರಿಯದದು ಮುಂದನೇನ ಬಲ್ಲುದೊ?
ಉದಯ ಮುಖದಲ್ಲಿ ಹುಟ್ಟಿದ ಪ್ರಾಣಿಗಳು ಅಸ್ತಮಾನಕ್ಕಳಿದರಲ್ಲಾ!
ಅಂದಂದಿನ ಘಟಜೀವಿಗಳು, ಬಂದ ಬಟ್ಟೆಗೆ ಹೋದರಲ್ಲಾ.
ಗುಹೇಶ್ವರನೆಂಬ ಲಿಂಗ ಅರಿಗೂ ಇಲ್ಲವಯ್ಯಾ. ॥೨॥

೩೧೩

ನೀರ ನಡುವೆ ಒಂದು ಗಿಡು ಹುಟ್ಟಿತ್ತು.
ಆ ಗಿಡುವಿನ ಎಲೆಯ ಮೇಲಬಂದಿತ್ತೊಂದು ಕೋಡಗ.
ಆ ಕೋಡಗದ ಕೊಂಬಿನಲ್ಲಿ ಮೂಡಿತ್ತು ಅದ್ಭುತ.
ಆ ಅದ್ಭುತವಳಿದಲ್ಲದೆ ಶರಣನಾಗಬಾರದು ಗುಹೇಶ್ವರಾ. ॥೩॥

೩೧೪

ನೇಮಸ್ತನರಿವು ಪ್ರಪಂಚಿನಲ್ಲಿ ಹೋಯಿತ್ತು.
ಭಕ್ತನ ಅರಿವು ಸಮಾಧಾನದಲ್ಲಿ ಹೋಯಿತ್ತು.
ಜಂಗಮದ ಅರಿವು ಬೇಡಿದಲ್ಲಿ ಹೋಯಿತ್ತು.
ಇಂತು – ಕ್ರಿಯಾಗಮದೊಳಗೆ ಅವಂಗವೂ ಇಲ್ಲ.
ಗುಹೇಶ್ವರಾ ನಿಮ್ಮ ಶರಣರಪೂರ್ವ. ॥೪॥

೩೧೫

ಹಸಿದಡೆ ಉಣಬಹುದೆ ನಸುಗುನ್ನಿ ತುರುಚಿಯನು ?
ಅವಸರಕಿಲ್ಲದ ದೊರೆಗೆ ಅರ್ಥವಿದ್ದಲ್ಲಿ ಫಲವೇನು ?
ಸಾಣೆಯ ಮೇಲೆ ಶ್ರೀಗಂಧವ ತೇವರಲ್ಲದೆ
ಇಟ್ಟಿಗೆಯ ಮೇಲೆ ತೇಯಬಹುದೆ ?
ರಂಭೆಯ ನುಡಿ ಸಿಂಬಿಗೆ ಶೃಂಗಾರವೆ ?

ಜ್ಞಾನಿಯ ಕೂಡೆ ಜ್ಞಾನಿ ಮಾತನಾಡುವನಲ್ಲದೆ
ಅಜ್ಞಾನಿಯ ಕೂಡೆ ಜ್ಞಾನಿ ಮಾತನಾಡುವನೆ ?
ಸರೋವರದೊಳಗೊಂದು ಕೋಗಿಲೆ ಸ್ವರಗೆಯ್ಯುತ್ತಿದ್ದಡೆ
ಕೊಂಬಿನ ಮೇಲೊಂದು ಕಾಗೆ ಕರೆನ್ನದೆ ? – ಅಂತೆ ಇದ್ದತ್ತು.
ಬರದಲ್ಲಿ ಬರಡ ಕರೆದೆಹೆನೆಂದು,
ಕಂದಲ ಕೊಂಡು ಹೋದರೆ,
ಕಂದಲೊಡೆದು ಕೈ ಮುರಿದಂತಾಯಿತ್ತು ಗುಹೇಶ್ವರಾ. ॥೫॥

೩೧೬

ಕಂಗಳ ಮುಂದೆ ಕತ್ತಲೆ ಇದೇನೊ?
ಮನದ ಮುಂದಣ ಮರಣ (ಮರವೆ ?) ಇದೇನೊ?
ಒಳಗಣ ರಣರಂಗ ಹೊರಗಣ ಶೃಂಗಾರ !
ಬಳಕೆಗೆ ಬಂದ ಬಟ್ಟೆ ಇದೇನೊ ಗುಹೇಶ್ವರಾ ? ॥೬॥

೩೧೭

ಉಚ್ಚೆಯ ಜವುಗಿನ ಬಚ್ಚಲ ತಂಪಿನಲ್ಲಿ:
ನಿಚ್ಚಕ್ಕೆ ಹೊರಳುವ ಓಹಂದಿಯಂತೆ,
ಶಿವನ ಇಚ್ಚೆಯನರಿಯದೆ ಮಾತನಾಡುವರ
ಮೆಚ್ಚುವನೆ ನಮ್ಮ ಗುಹೇಶ್ವರಲಿಂಗವು ? ॥೭॥

೩೧೮

ಒಂದರ ಮೋರೆಯನೊಂದು ಮೂಸಿನೋಡಿ
ಮತ್ತೊಬ್ಬಿ ಬೇಕಿಂಗೆ (ಹೊತ್ತಿಂಗೆ ?) ಕಚ್ಚಿಯಾಡಿ ಹೋದಂತೆಯಾಯಿತ್ತು,
ನೋಡಿರೆ, ಕಲಿಯುಗದೊಳಗಣ ಮೇಳಾಪವ !
ಗುರುವೆಂಬಾತ ಶಿಷ್ಯನಂತುವನರಿಯ.
ಶಿಷ್ಯನೆಂಬಾತ ಗುರುವಿನಂತುವನರಿಯ.
ಭಕ್ತರೆಂಬವರು ಭಕ್ತರೊಳಗೆ ಸಮವಿಲ್ಲ.
ಜಂಗಮರೆಂಬವರು ಜಂಗಮದೊಳಗೆ ಸಮವಿಲ್ಲ.
ಇದು ಕಾರಣ – ಕಲಿಯುಗದೊಳಗೆ ಉಪದೇಶವ ತೋರುವ (ಮಾಡುವ ?)
ಕಾಳಗುರಿಕೆಯ ಮಕ್ಕಳನೇನೆಂಬೆ ಗುಹೇಶ್ವರಾ ? ॥೮॥

೩೧೯

ಅಂಬರದೊಳಗೊಂದು ಅಡವಿ ಹುಟ್ಟಿತ್ತು.
ಆ ಅಡವಿಯೊಳಗೊಬ್ಬ ವ್ಯಾಧನೈದಾನೆ.
ಆ ವ್ಯಾಧನ ಕೈಯಲ್ಲಿ ಸಿಕ್ಕಿತ್ತು ಒಂದು ಮೃಗವು.
ಆ ಮೃಗವ ಕೊಂದಲ್ಲದೆ ವ್ಯಾಧ ಸಾಯನು !
ಅರಿವು ಬರಿದುಂಟೆ ಗುಹೇಶ್ವರಾ ? ॥೯॥

೩೨೦

ಒಳಗೆ ನೋಡಿಹೆನೆಂದಡೆ ಒಳಗ ನೋಡಲಿಲ್ಲ.
ಹೊರಗೆ ನೋಡಿಹೆನೆಂದಡೆ ಹೊರಗ ನೋಡಲಿಲ್ಲ.
ಜ್ಞಾನವೆಂತುಟೊ? ಅಜ್ಞಾನವೆಂತುಟೊ ?
ಬಲೆಯ ಬೀಸಿ ಕೊಲುವನ ಮನೆಯಲ್ಲಿ ಸತ್ತಡೆ
ಏನು ಕಾರಣ ಅಳುವರೊ ಗುಹೇಶ್ವರಾ ? ॥೧೦॥

೩೨೧

ಸತ್ಯವಿಲ್ಲದವರೊಡನೆ ಸಹಸ್ರಕ್ಕೊಮ್ಮೆ ನುಡಿಯಲಾಗದು,
ಲಕ್ಷಕ್ಕೊಮ್ಮೆ ನುಡಿಯಲಾಗದು, ಕೋಟಿಗೊಮ್ಮೆ ನುಡಿಯಲಾಗದು.
ಸುಡಲಿ–ಅವಂದಿರ ಕೂಡೆ ಮಾರಿ ಹೋರಲಿ.
ಗುಹೇಶ್ವರಾ ನಿಮ್ಮ ಶರಣರಲ್ಲದವರೊಡನೆ,
ಬಾಯಿದೆರೆಯಲಾಗದು. ॥೧೧॥

೩೨೨

ಅಗ್ನಿಯ ಒಡಲೊಳಗೊಬ್ಬ ಆಕಾಶವರ್ಣದ ಸೂಳೆ;
ಆ ಸೂಳೆಗೆ ಮೂವರು ಮಕ್ಕಳು ನೋಡಾ !
ಆ ಮಕ್ಕಳ ಕೈ ಬಾಯಲ್ಲಿ ಮೂರುಲೋಕ ಮರುಳಾಗಿ
ಅಚ್ಚುಗಬಡುತ್ತಿರ್ದಡೇನು ಚೋದ್ಯವೊ ?
ಕರಿಯ ಬಣ್ಣದ ಮುಸುಕನುಗಿದು ಬೆರೆಸಬಲ್ಲ ಶರಣಂಗಲ್ಲದೆ
ಪರಮತತ್ವ(ಪರತತ್ವ ?)ವೆಂಬುದು ಸಾಧ್ಯವಾಗದು ಗುಹೇಶ್ವರಾ. ॥೧೨॥

೩೨೩

ಸರ್ಪ ಸಂಸಾರಿಯೊಡನಾಡಿ ಕಟ್ಟುವಡೆಯಿತ್ತು,
ಮನವ ತಮಂಧ ಬಿಡದು ಮನದ ಕಪಟ ಬಿಡದು.

ಸಟೆಯೊಡನೆ ದಿಟವಾಡೆ ಬಯಲು ಬಡಿವಡೆಯಿತ್ತು !
ಕಾಯದ ಸಂಗದ ಜೀವವುಳ್ಳನ್ನಕ್ಕರ,
ಎಂದೂ ಭವ ಹಿಂಗದು ಗುಹೇಶ್ವರಾ. ॥೧೩॥

೩೨೪

ವೇದ ವೇಧಿಸಲರಿಯದೆ ಕೆಟ್ಟವು, ಶಾಸ್ತ್ರ ಸಾಧಿಸಲರಿಯದೆ ಕೆಟ್ಟವು,
ಪುರಾಣ ಪೂರೈಸಲರಿಯದೆ ಕೆಟ್ಟವು.
ಹಿರಿಯರು ತಮ್ಮ ತಮ್ಮ(ತಾವು ?) ಅರಿಯದೆ ಕೆಟ್ಟರು:
ತಮ್ಮ ಬುದ್ಧಿ ತಮ್ಮನ್ನೇ ತಿಂದಿತ್ತು.
ನಿಮ್ಮನೆತ್ತ ಬಲ್ಲರೊ ಗುಹೇಶ್ವರಾ ? ॥೧೪॥

೩೨೫

ಕರಗಿಸಿ ನೋಡಿರೆ ಅಣ್ಣಾ ಕರಿಯ ಘಟ್ಟಿಯನು.
ಆ ಕರಿಯ ಘಟ್ಟಿಯೊಳಗೊಂದು ರತ್ನವಿಪ್ಪುದು.
ಆ ರತ್ನದ ಪರೀಕ್ಷೆಯ ಬಲ್ಲೆವೆಂಬವರೆಲ್ಲರ ಕಣ್ಣುಗೆಡಿಸಿತ್ತು ನೋಡಾ !
ಆರುಹಿರಿಯರೆಲ್ಲರೂ ಮರುಳಾಗಿ ಹೋದರು.
ಕರಿಯ ಘಟ್ಟಿಯ ಬಿಳಿದು ಮಾಡಿ
ಮುಖದ ಮುದ್ರೆಯನೊಡೆಯಬಲ್ಲವರಿಗಲ್ಲದೆ
ಗುಹೇಶ್ವರನ ನಿಲವನರಿಯಬಾರದು ನೋಡಿರಣ್ಣಾ. ॥೧೫॥

೩೨೬

ನದೀಜಲ, ಕೂಪಜಲ, ತಟಾಕಜಲವೆಂದಂಬು
ಹಿರಿದು ಕಿರಿದಾದುದನರಿಯರು.
ಬೇರೆ ಮತ್ತೊಂದು ಭಾಷೆ ವ್ರತ ನೇಮಂಗಳ ಹಿಡಿವ
ಶೀಲಸಂಬಂಧಿಗಳು ಜಾತ್ಯಂಧರು,
ನಿಮ್ಮನೆತ್ತಬಲ್ಲರು ಗುಹೇಶ್ವರಾ ? ॥೧೬॥

೩೨೭

ಶೀಲಶೀಲವೆಂಬ [ನೀಲಿಗ]ವಾರ್ತೆಯ ಬೇಳುವೆ,
ಬಾಲರಾಳಿಯಂತೆ ಆಳಿಗೊಂಡಿತ್ತು.
ಹೇಳಲಿಲ್ಲ ಕೇಳಲಿಲ್ಲದ ವಳಾವಳಿಯ ಬರಿಯ ಶಬ್ದ, ಬಯಲ ಹೋರಟೆ !

ಅಂಗಸುಖಿಗಳಿಗೆ ಲಿಂಗವಿಲ್ಲಾಗಿ,
ಗುಹೇಶ್ವರನೆಂಬ ಶೀಲವು ಸೀಮೆಯ ಮೀರಿ ಕಾಡಿತ್ತು. ॥೧೭॥

೩೨೮

ಹಾಳೂರೊಳಗೊಂದು ಮನೆಯ ಮಾಡಿ ಬದುಕ ಹೋದಡೆ,
ಕಾಳೋರಗ ಬಂದು ಕಡಿಯಿತ್ತು ನೋಡಾ !
ಕೇರಿ ಕೇರಿಯೊಳಗೆಲ್ಲಾ ಹರಿದಾಡುತ್ತಿದ್ದವು,
ಮಾರಿಯ ತೋರದ ಮದಗಜಂಗಳು.
ಚಿತ್ರಗುಪ್ತನ ಕೈಯ ಚಿತ್ರವ ತಿಳಿದು ನೋಡಿದಡೆ,
ಹಾಳೂರು ಹಾಳಾಯಿತ್ತು ಗುಹೇಶ್ವರಾ ! ॥೧೮॥

೩೨೯

ಬಲ್ಲತನವನೇರಿಸಿಕೊಂಡು ಅಲ್ಲದಾಟವನಾಡಿದಡೆ
ಬಲ್ಲತನಕ್ಕೆ ಭಂಗವಾಯಿತ್ತು.
ವ್ಯಸನದಿಚ್ಛೆಗೆ ಹರಿದಾಡುವವರು ಬಲ್ಲಡೆ ಹೇಳಿರೆ ?
ಕಾಮ ಕ್ರೋಧ ಲೋಭ ಮೋಹ ಮದ ಮತ್ಸರದಿಚ್ಛೆಗೆ ಹರಿದು
ಹಂದಿಯೊಡನಾಡಿದ ಕಂದಿನಂತಾದರು.
ಇನ್ನು ಬಲ್ಲರೆ ಗುಹೇಶ್ವರಾ ಮಾಯಾಮುಖರು ನಿಮ್ಮನು ? ॥೧೯॥

೩೩೦

ನಾಣ ಮರೆಯ ನಾಚಿಕೆ ಒಂದು ನೂಲ ಮರೆಯಲಡಗಿತ್ತು.
ಬಲ್ಲೆನೆಂಬ ಅರುಹಿರಿಯರೆಲ್ಲಾ ಅಲ್ಲಿಯೇ ಮರುಳಾದರು.
ನೂಲ ಮಾರಿ ಹತ್ತಿಯ ಬಿಲಿಯ ಹೋದರೆ,
ಅದು ಅತ್ತಲೆ ಹೋಯಿತ್ತು ಗುಹೇಶ್ವರಾ. ॥೨೦॥

೩೩೧

ಧರೆಯ ಮೇಲೊಂದು ಅರಿದಪ್ಪ ರತ್ನ ಹುಟ್ಟಿರಲು,
ಅದನರಸಲರಸ ಹೋಯಿತ್ತಯ್ಯಾ.
ನಡುನೀರೊಳಗೆ ಮುಳುಗಿ, ಆಳವರಿದು ನೋಡಿ,
ಕಂಡೆಹೆನೆಂದಡೆ ಕಾಣಬಾರದು.
ಧಾರೆವಟ್ಟಲ ಕಳೆದುಕೊಂಡು ನೀರ ಶೋಧಿಸಿ ನೋಡಿದಡೆ

ದೂರದಲ್ಲಿ ಕಾಣಬರುತ್ತಿಹುದು ನೋಡಾ.
ಸಾರಕ್ಕೆ ಹೋಗಿ ಹಿಡಿದುಕೊಂಡೆನೆಂಬ ಧೀರರೆಲ್ಲರ ಮತಿಯ
ಬಗೆಯ ನುಂಗಿತ್ತು ಗುಹೇಶ್ವರಾ. ॥೨೦॥

೩೩೨

ಉಪಚಾರದ ಗುರುವಿಂಗೆ ಉಪಚಾರದ ಶಿಷ್ಯನು,
ಉಪಚಾರದ ಲಿಂಗ ಉಪಚಾರದ ಜಂಗಮವು,
ಉಪಚಾರದ ಪ್ರಸಾದವ ಕೊಂಡು, ಗುರುವಿಂಗೆ ಭವದ ಲೆಂಕನಾಗೆ,
ಅಂಧನ ಕೈಯ ಅಂಧಕ ಹಿಡಿದಂತೆ–
ಇಬ್ಬರೂ ಹೊಲಬುಗೆಟ್ಟರು ಕಾಣಾ ಗುಹೇಶ್ವರಾ. ॥೨೨॥

೩೩೩

ಲಿಂಗ-ಜಂಗಮದ ಸಂಬಂಧ ಸಯವ ಮಾಡಿಹೆನೆಂಬರು,
ಗುರು ಮುನ್ನವೊ ? ಶಿಷ್ಯ ಮುನ್ನವೊ ?
ಆವುದು ಮುನ್ನವೆಂದರಿಯರು ನೋಡಾ !
ಇದು ಕಾರಣ– ಆವ ಸಂಬಂಧವನರಿಯರು ಗುಹೇಶ್ವರಾ. ॥೨೩॥

೩೩೪

ಕಾಮವ ಸುಟ್ಟು ಹೋಮವನುರುಹಿ, ತ್ರಿಪುರಸಂಹಾರದ ಕೀಲ ಬಲ್ಲಡೆ,
ಯೋಗಿಯಾದಡೇನು ? ಭೋಗಿಯಾದಡೇನು ?
ಶೈವನಾದಡೇನು ? ಸನ್ಯಾಸಿಯಾದಡೇನು ?
ಅಶನವ ತೊರೆದಾತ ವ್ಯಸನವ ಮರೆದಾತ–
ಗುಹೇಶ್ವರಲಿಂಗದಲ್ಲಿ ಅವರ ಹಿರಿಯರೆಂಬೆನು. ॥೨೪॥

೩೩೫

ನಾನು ಘನ ತಾನು ಘನವೆಂಬ ಹಿರಿಯರುಂಟೆ ಜಗದೊಳಗೆ ?
ಹಿರಿದು ಕಿರಿದೆಂದಲ್ಲಿ ಏನಾಯಿತ್ತು ?
ಹಿರಿದು ಕಿರಿದೆಂಬ ಶಬ್ದವಡಗಿದರೆ,
ಆತನೆ ಶರಣ ಗುಹೇಶ್ವರಾ. ॥೨೫॥

೩೩೬

ನಾಮ ನೇಮಂಗಳಾಗಿಪ್ಪ ಹಿರಿಯರು ಆದಿಕುಳವನರಿಯರಾಗಿ,
ಇದೇನಯ್ಯಾ, ಸೂಕ್ಷ್ಮದ ಗಂಟಲಗಾಣವಿದೇನಯ್ಯಾ ?
ನೆಳಲ ರೂಹಿಂಗೆ ಬಯಲು ಸಯವೆ
ಅಪಾಯರಹಿತ ಗುಹೇಶ್ವರಾ ? ॥೨೬॥

೩೩೭

ಜೀವತಾಮಸದ ಮಾಯದ ಬಲೆಯ ಭ್ರಾಂತಿಂಗೆ ಸೋಲುವ ಶರೀರ !
ಸಂಸಾರ ಸಂಗವ ಭೇದಿಸಿ ನೋಡುವಡೆ ದೂರ,
ಚಿಂತೆಯನೆ ಗೆಲಿದು ಸುಳಿದಡೆ,
ಗುಹೇಶ್ವರನೆಂದರಿದ ಶರಣಸಾರಾಯನು. ॥೨೭॥

೩೩೮

ಹುಟ್ಟಿ ಕೆಟ್ಟಿತ್ತು ಭಾಗ, ಹುಟ್ಟದೆ ಕೆಟ್ಟಿತ್ತು ಭಾಗ,
ಮುಟ್ಟಿ ಕೆಟ್ಟಿತ್ತು ಭಾಗ, ಮುಟ್ಟದೆ ಕೆಟ್ಟಿತ್ತು ಭಾಗ.
ಇದೇನೊ ? ಇದೆಂತೊ? ಅರಿಯಲೆ ಬಾರದು.
ಇದೇನೊ ಇದೆಂತೊ ಎಂಬ ಎರಡು ಮಾತಿನ ನಡುವೆ,
ಉರಿ ಹತ್ತಿತ್ತು ಮೂರು ಲೋಕವ ಗುಹೇಶ್ವರಾ. ॥೨೮॥

೩೩೯

ಬಿರುಗಾಳಿ ಬೀಸಿ ಮರ ಮುರಿವಂತಹ ಸುಳುಹ ಸುಳಿಯದೆ,
ತಂಗಾಳಿ ಪರಿಮಳದೊಡಗೂಡಿ ಸುಳಿವಂತೆ ಸುಳಿಯಬೇಕು.
ಸುಳಿದಡೆ ನೆಟ್ಟನೆ ಜಂಗಮವಾಗಿ ಸುಳಿಯಬೇಕು.
ನಿಂದಡೆ ನೆಟ್ಟನೆ ಭಕ್ತನಾಗಿ ನಿಲ್ಲಬೇಕು.
ಸುಳಿದು ಜಂಗಮವಾಗಲರಿಯದ, ನಿಂದು ಭಕ್ತನಾಗಲರಿಯದ
ಉಭಯಭ್ರಷ್ಟರನೇನೆಂಬೆ ಗುಹೇಶ್ವರಾ. ॥೨೯॥

೩೪೦

ಕಾರ ಮೇಘವೆದ್ದು ಧಾರಾವರ್ತ ಸುರಿವಾಗ,
ಧಾರುಣಿಯೆಲ್ಲವೂ ಮುಳುಗಿತ್ತು ನೋಡಾ !
ಕಾರಿರುಳ ಕಣ್ಣೊಳಗೆ ಸೂರ್ಯರನೇಕರು ಮೂಡಿ
ದಾರಿಯು ಹೊಲಬೆಂಬುದು ಕೆಟ್ಟಿತ್ತು ನೋಡಾ !

ಪೂರಾಯ ಗಾಯದಲ್ಲಿ ಸಾಯೆ ಕೊಂದಲ್ಲದೆ
ಸೂರಿಯ (ಸೂರ್ಯ?)ರನೇಕರು ಮಡಿಯರು ಗುಹೇಶ್ವರಾ. ॥೩೦॥

೩೪೧

ತಾನು ಮಿಂದು ಕಾಲ ತೊಳೆದ ಬಳಿಕ
ಲಿಂಗಕ್ಕೆ ಮಜ್ಜನಕ್ಕೆರೆವರು.
ತಾನು ಲಿಂಗವೊ ಲಿಂಗ ಲಿಂಗವೊ ?
ಏನು ಲಿಂಗ[ವು]? ಬಲ್ಲಡೆ ನೀವು ಹೇಳಿರೆ.
ಲಿಂಗಸಂಬಂಧವನರಿಯದೆ ಕೆಟ್ಟರು ಗುಹೇಶ್ವರಾ. ॥೩೧॥

೩೪೨

ಕಾರಿಯ (ಕಾರ್ಯ?)ವನರಿಯರು ಕೊರತೆಯನರಿಯರು.
ವಾಯಕ್ಕೆ ಬಳಲುವರು ತಾವು ಜ್ಞಾನಿಗಳೆಂದು.
ತಾಯಿಯಿಲ್ಲದ ಮೂಲನ ತಲೆವಿಡಿಯಲರಿಯದೆ
ದೇವರಾದೆವೆಂದಡೆ ನಾಚಿದೆನು ಗುಹೇಶ್ವರಾ. ॥೩೨॥

೩೪೩

ನಡೆವರಿಗೊಂದು ಬಟ್ಟೆ, ಮನೆಯ ಒಡೆಯರಿಗೊಂದು ಬಟ್ಟೆ.
ನಡೆಯದು ನಡೆಯದು ಹೋ ನಡೆಗೆಟ್ಟಿತ್ತು ನಿಂದಿತ್ತಲ್ಲಾ!
ಗಮನಾಗಮನದ ನುಡಿಯ ಬೆಡಗಿನ ಕೀಲ,
ಮಡಗಿದಾತ ಬಲ್ಲ ಗುಹೇಶ್ವರಾ. ॥೩೩॥

೩೪೪

ಸುತ್ತಿಸುತ್ತಿ ಬಂದಡಿಲ್ಲ, ಲಕ್ಷ ಗಂಗೆಯ ಮಿಂದಡಿಲ್ಲ.
ತುಟ್ಟ ತುದಿಯ ಮೇರುಗಿರಿಯ ಮೆಟ್ಟಿ ಕೂಗಿದಡಿಲ್ಲ.
ನಿತ್ಯನೇಮದಿಂದ ತನುವ ಮುಟ್ಟಿಕೊಂಡಡಿಲ್ಲ.
ನಿಚ್ಚಕ್ಕನ ಗಮನವಂದಂದಿಗೆ;
ಅತ್ತಲಿತ್ತ ಹರಿವ ಮನವ ಚಿತ್ತದಲಿ ನಿಲಿಸಬಲ್ಲಡೆ
ಬಚ್ಚಬರಿಯ ಬೆಳಗು ಗುಹೇಶ್ವರನೆಂಬ ಲಿಂಗವು. ॥೩೪॥

೩೪೫

ಏನೆಂದರಿಯರು ಎಂತೆಂದರಿಯರು,
ಅರಿವನರಿದೆವೆಂಬರು, ಮರಹ ಮರೆದೆವೆಂಬರು.
ಒಂದನರಿದೆನೆಂದಡೆ ಮುಖ ಮೂರಾಯಿತ್ತು.
ಮೂರು ಮುಖವ ಏಕಾಗ್ರಹಕವ ಮಾಡಿದಲ್ಲದೆ
ಶರಣನಲ್ಲ ಗುಹೇಶ್ವರಾ. ॥೩೫॥

೩೪೬

ಪರಿಪರಿಯ ಅವಲೋಹ[ವ] ಪರುಷ ಮುಟ್ಟಲು
ಹೊನ್ನು ಪರಿವರ್ತನಕ್ಕೆ ಬಂದು ಸಲುತ್ತಿರ್ದುವು ನೋಡಾ
ಪರುಷವ ಮಾಡುವ ಪುರುಷರೆಲ್ಲರು
ಪರುಷ ಮುಟ್ಟಿದ ಹೊನ್ನಿನಂತಿದ್ದರು ನೋಡಾ.
ಪರುಷ ತಾನಾಗಲು, ಹರಿಬ್ರಹ್ಮರಿಗಳವಲ್ಲ.
ಸುರರು ಕಿನ್ನರರೆಲ್ಲರು ನಿಮ್ಮ ವರದಲ್ಲಿ ಸಿಲುಕಿದ್ದರು.
ಪರುಷದಂತಿದ್ದರು ನಮ್ಮ ಗಹೇಶ್ವರನ ಶರಣರು. ॥೩೬॥

೩೪೭

ಮಾಮರದೊಳಗೊಂದು ಮಾಯದ ಮಂಜು ಕವಿದಡೆ,
ಹೂ ಮಿಡಿ ಫಲಂಗಳು ಉದುರವಿನ್ನೆಂತೊ ?
ಮಂಜಿನ ರಸವನುಂಡು ಫಲ ನಿಮಿರ್ದು ಬೆಳೆದಡೆ,
ಆ ಫಲವ ನಾನು ಮುಟ್ಟೆನು ಕಾಣಾ ಗುಹೇಶ್ವರಾ. ॥೩೭॥

೩೪೮

ಸಂಸಾರಸಂಗವ ಭೇದಿಸಿ ನೋಡುವಡೆ,
ದೂರವೆ ? ಕಪಟ ಕನ್ನಡವೆ ?
ರವಿಯ ತಪ್ಪಿಸಿ ಸುಳಿವ ಗುಹೇಶ್ವರನೆಂದರಿದ ಶರಣ ಸಂಸಾರಿಯೆ ? ॥೩೮॥

೩೪೯

ತನ್ನ ತಾನರಿದೆನೆಂಬವನ ಮುನ್ನ ನುಂಗಿತ್ತು ಮಾಯೆ.
ನಿನ್ನೊಳಗೆ ಅರಿವು ಭಿನ್ನವಾಗಿರುತ್ತಿರಲು
ಮುನ್ನವೆ ನೀನು ದೂರಸ್ಥ ನೋಡಾ !

ಭಿನ್ನವಿಲ್ಲದ ಅಜ್ಞಾನವ ಭಿನ್ನವ ಮಾಡಬಲ್ಲಡೆ
ತನ್ನಲ್ಲಿ ಅರಿವು ನಿಜವಪ್ಪುದು ಗುಹೇಶ್ವರಾ. ॥೩೯॥

೩೫೦

ಸುಖವ ಬಲ್ಲಾತ ಸುಖಿಯಲ್ಲ, ದುಃಖವ ಬಲ್ಲಾತ ದುಃಖಿಯಲ್ಲ.
ಸುಖ–ದುಃಖವೆರಡನೂ ಬಲ್ಲಾತ ಜ್ಞಾನಿಯಲ್ಲ.
ಹುಟ್ಟಿದ ಮುನ್ನ ಸತ್ತವರ ಕುರುಹ ಬಲ್ಲಡೆ,
ಬಲ್ಲ ಗುಹೇಶ್ವರ. ॥೪೦॥

೩೫೧

ದರ್ಪಣದೊಳಗಣ ರೂಹಿಂಗೆ ಆ ದರ್ಪಣವೆ ಉತ್ಪತ್ತಿ ಸ್ಥಿತಿ ಲಯವಲ್ಲದೆ
ಮರ್ತ್ಯಲೋಕದೊಳಗಣ ಆಕೃತಿ ಅಲ್ಲಿಲ್ಲವೇಕಯ್ಯಾ ?
ಆ ಲೋಕದೊಳಗೆ ಉತ್ಪತ್ಯ(ತ್ತಿ ?) ಸ್ಥಿತಿ ಲಯ–ಇದೆಂತಹ ಕರ್ಮಬದ್ಧರು ?
ಒಂದರ ಪರಿ ಒಂದಕ್ಕಿಲ್ಲ ಕಂಡಿರೆ !
ದೃಷ್ಟವಹ ಗುರುಹಸ್ತದೊಳಗಣ ಸದ್ಭಕ್ತಂಗೆ,
ಅಲ್ಲಿಯ ಉತ್ಪತ್ತಿ ಸ್ಥಿತಿ ಲಯ–ಇದೆಂತಹ ಕರ್ಮದ ಪರಿಯೊ ?
ಮತ್ತಾವ ಪರಿಯೂ ಇಲ್ಲ, ಲಿಂಗದ ಪರಿಯ ಮಾಡಿದ ಗುಹೇಶ್ವರ. ॥೪೧॥

೩೫೨

ಮನದ ಮರವೆ ತನುವಿನಲ್ಲಿರಲು ಅದೆಂತೊ ಅರಿವು ?
ಎರಡು ಬೆಟ್ಟಕ್ಕೆ ಒಂದೆ ತಲೆಯೊಡ್ಡಿ ಧರಿಸಿದ ಬಳಿಕ,
ತಲೆ ಕಾಲಿಗೆ ಇಕ್ಕಿದ ಬಳ್ಳಿ ಎಂತು ಹರಿವುದೊ ?
ಗುಹೇಶ್ವರಾ, ನಿಮ್ಮ ಶರಣರು,
ಬಾರದ ಭವದಲ್ಲಿ ಬಂದ ಕಾರಣ–ಸುಖಿಗಳಾದರಯ್ಯಾ. ॥೪೨॥

೩೫೩

ಲೋಕ ಒಂದನೆಂದಡೆ ತಾನೊಂದನೆನಬೇಡ.
ಮತ್ತಾರೇನೆಂದಡೆಯೂ ತನ್ನನೆಂದರೆನಬೇಡ.
ಭೈತ್ರಕ್ಕೆ ಬೆಂಗುಂಡನಿಕ್ಕಿದಂತಿರಬೇಕು ಹಿರಿಯರು–ಗುಹೇಶ್ವರಾ. ॥೪೩॥

೩೫೪

ನಾಚಿ ಮಾಡುದು ಮಾಡುದಲ್ಲ, ನಾಚದೆ ಮಾಡುದು ಮಾಡುದಲ್ಲ.
ಹೇಸಿ ಮಾಡುದು ಮಾಡುದಲ್ಲ, ಹೇಸದೆ ಮಾಡುದು ಮಾಡುದಲ್ಲ.
ಆಲಸಿ ಮಾಡುದು ಮಾಡುದಲ್ಲ, ಆಲಸದೆ ಮಾಡುದು ಮಾಡುದಲ್ಲ.
ನಾಚದೆ ಹೇಸದೆ ಆಲಸದೆ ಮಾಡಡೆ ಮಾಡುದು–ಗುಹೇಶ್ವರಾ. ||೪೪||

೩೫೫

ಬಂದುದನೆಲ್ಲವ ನುಂಗಿ, ಬಾರದುದನೆಲ್ಲವ ನುಂಗಿ,
ಆರಿಗಿಲ್ಲದ ಅವಸ್ಥೆ ಎನಗಾಯಿತ್ತು.
ಆ ಅವಸ್ಥೆ ಅರತು ನೀನು, ನಾನೆಂದರಿದೆ ಗುಹೇಶ್ವರಾ. ||೪೫||

೩೫೬

ಅಂಗಜೀವಿಗಳೆಲ್ಲಾ ಅಶನಕ್ಕೆ ನೆರೆದು, ಲಿಂಗವಾರ್ತೆಯ ನುಡಿವರಯ್ಯಾ.
ಕಾಯಜೀವಿಗಳೆಲ್ಲಾ ಕಳವಳಿಸಿ ನುಡಿವರಯ್ಯಾ.
ಮನಬಂದ ಪರಿಯಲ್ಲಿ ನುಡಿವಿರಿ,
ಗುಹೇಶ್ವರಲಿಂಗ ನಿಮಗೆಲ್ಲಿಯದೊ ? ||೪೬||

೩೫೭

ಆದಿಯನರಿಯರು ಅನಾದಿಯನರಿಯರು,
ಒಂದರೊಳಗಿಪ್ಪ ಎರಡನರಿಯರು,
ಎರಡರೊಳಗಿಪ್ಪ ಮೂರರ ಕೀಲನರಿಯರು,
ಮೂರರ ಸಂದು ಆರಾದುದನರಿಯರು.
ಆರೆಂದು ನುಡಿವ ಗಾರು ಮಾತು ತಾನಲ್ಲ
ಗುಹೇಶ್ವರ[ನ] ನಿಲವನರಿದಡೆ, _ ಒಂದೂ ಇಲ್ಲ.
ಅರಿಯದಿರ್ದಡೆ ಬಹುಮುಖವಯ್ಯಾ. ||೪೭||

೩೫೮

ಸುಖವಿಲ್ಲ ಸೂಳೆಗೆ ಪಥವಿಲ್ಲ ಶೀಲಕ್ಕೆ
ಮಾಡಲಾಗದು ನೇಮವ, ನೋಡಲಾಗದು ಶೀಲವ.
ಸತ್ಯವೆಂಬುದೆ ಸತ್‌ಶೀಲ,–ಗುಹೇಶ್ವರಲಿಂಗವನರಿಯ ಬಲ್ಲಂಗೆ ! ||೪೮||

೩೫೯

ಆಕಾರ ನಿರಾಕಾರವೆಂಬೆರಡೂ ಸ್ವರೂಪಂಗಳು :
ಒಂದು ಆಹ್ವಾನ, ಒಂದು ವಿಸರ್ಜನ,
ಒಂದು ವ್ಯಾಕುಳ, ಒಂದು ನಿರಾಕುಳ.
ಉಭಯಕುಳರಹಿತ ಗುಹೇಶ್ವರಾ–ನಿಮ್ಮ ಶರಣ ನಿಶ್ಚಿಂತನು. ॥೪೯॥

೩೬೦

ತುಂಬಿದ ತೊರೆಯ ಹಾಯ್ದಹೆವೆಂದು
ಹರುಗೋಲನೇರುವ ಅಣ್ಣಗಳು ನೀವು ಕೇಳಿರೆ.
ತೊರೆಯೊಳಗಣ ನೆಗಳು ಹರುಗೋಲ ನುಂಗಿದಡೆ, ಗತಿಯಿಲ್ಲ.
ಎಚ್ಚತ್ತು ನಡಿಸಿರೆ.
ನಡುದೊರೆಯಲ್ಲಿ ಹುಟ್ಟು ಹಾಯ್ಕಿದಡೆ,
ಹರುಗೋಲು ಮುಳುಗದೆ, ಏರಿದವರು ಸತ್ತರು.
ಇದರೊಳಹೊರಗನರಿದಾತನಲ್ಲದೆ
ಗುಹೇಶ್ವರಲಿಂಗದಲ್ಲಿ ಅಚ್ಚ ಶರಣನಲ್ಲ. ॥೫೦॥

೩೬೧

ಬಲ್ಲನಿತ ಬಲ್ಲರಲ್ಲದೆ, ಅರಿಯದುದನೆಂತು ಬಲ್ಲರಯ್ಯಾ ?
ಅರಿವು ಸಾಮಾನ್ಯವೆ ?
ಅರಿಯದುದನಾರಿಗೂ ಅರಿಯಬಾರದು
ಗುಹೇಶ್ವರನೆಂಬ ಲಿಂಗವನರಿಯದಡೆರಡು, ಅರಿದೊಡೊಂದೇ
॥೫೧॥

೩೬೨

ಅರಿದೆವರಿದೆವೆಂಬಿರಿ ಅರಿದ ಪರಿಯೆಂತು ಹೇಳಿರೆ ?
ಅರಿದವರು ಅರಿದೆವೆಂಬರೆ ?
ಅರಿಯಬಾರದ ಘನವನರಿದು,
ಅರಿಯದಂತಿಪ್ಪರು ಗುಹೇಶ್ವರಾ. ॥೫೨॥

೩೬೩

ಅಲ್ಪಜ್ಞಾನಿ ಪ್ರಕೃತಿ ಸ್ವಭಾವಿ, ಮಧ್ಯಮಜ್ಞಾನಿ ವೇಷಧಾರಿ,
ಅತೀತಜ್ಞಾನಿ ಆರೂಢ. ಆರೂಢನಾದರೂ ಅರಿಯಬಾರದಯ್ಯಾ.
ಜ್ಞಾನವನರಿಯದಾತ ಅಜ್ಞಾನಿ. ನಾಮನಷ್ಟ.

ಈ ಚತುರ್ವಿಧದೊಳಗೆ ಆವಂಗವೂ ಇಲ್ಲ,
ಗುಹೇಶ್ವರಾ–ನಿಮ್ಮ ಶರಣ. ॥೫೩॥

೩೬೪

ಕಂಕಳ ತೂಕ (ನೋಟ ?)ಲಿಂಗಕ್ಕೆ ಭಾರ.
ಅಂಗಜೀವಿಗಳ ಕೂಡೆ ನುಡಿವನೆ ಶರಣನು ?
ನಡೆನುಡಿ ಮುಗ್ಧ, ಗುಹೇಶ್ವರಾ ನಿಮ್ಮ ಶರಣ. ॥೫೪॥

೩೬೫

ದೂರದ ತುದಿಗೊಂಬನಾರಯ್ಯ ಗೆಲುವರು ?
ಮೀರಲಿಲ್ಲದ ನಿರಾಳದ ಘನವನು (ನಿಲವನು ?),
ಮೀರಿ, ಕಾಬ ಘನವನು ಬೇರೆ ತೋರಲಿಲ್ಲ.
ತೋರಿ ಕಾಬಡೆ ತನ್ನ ಹಿಡಿಯಲಿಲ್ಲ.
ಓರೆ ಆವಿನ ಹಾಲನಾರಯ್ಯ ಕರೆವರು ?
ಮೂರು ಲೋಕದೊಳಗೆ ತಾನಿಲ್ಲ ಗುಹೇಶ್ವರಾ. ॥೫೫॥

೩೬೬

ನಚ್ಚುಮಚ್ಚಿಂಗೆ ಪೂಜಿಸಿ ನಿಶ್ಚಯವೆಂದೆನಲಿಲ್ಲ.
ತಾನು ಲಿಂಗವೊ ? ಪ್ರಾಣ ಲಿಂಗವೊ ?
ಆವುದು ಲಿಂಗ ? ಬಲ್ಲವರು ನೀವು ಹೇಳಿರೆ
ಅಂಗದಲ್ಲಿ ಅಂ(ಸಂ ?)ಗಿಯಲ್ಲ, ಸಂಗದಲ್ಲಿ ವ್ಯಸನಿಯಲ್ಲ
ಅಂಗವಿಲ್ಲದ ಸಂಗ ಗುಹೇಶ್ವರ ನಿಮ್ಮ ಶರಣ. ॥೫೬॥

೩೬೭

ಎನ್ನಲ್ಲಿ ನಾನು ದೃಷ್ಟವೆಂದಡೆ
ನಿಮ್ಮಲ್ಲಿ ನೀವು ಮೆಚ್ಚುವಿರೆ ?
ಸಂದೇಹದಿಂದ ಸವೆಯಿತ್ತು ಲೋಕವು.
ಕನ್ನಡಿಯುಂಡ ಬಿಂಬ, ಕಬ್ಬನವುಂಡ ನೀರು.
ಕಬ್ಬಿಸಿಲು ಅರಿಸಿನವ ನುಂಗಿದಂತೆ ಗುಹೇಶ್ವರಾ ನಿಮ್ಮ ಶರಣರು. ॥೫೭॥

೩೬೮

ಉಗುಳ ನುಂಗಿ, ಹಸಿವ ಕಳೆದು, ತೆವರ ಮಲಗಿ ನಿದ್ರೆಗೆಯ್ದು
ನೋಡಿ ನೋಡಿ ಸುಖಂಬಡೆದೆನಯ್ಯಾ.
ಗುಹೇಶ್ವರಾ ನಿಮ್ಮ ವಿರಹದಲ್ಲಿ ಕಂಗಳೇ ಕರುವಾಗಿರ್ದೆನಯ್ಯಾ. ॥೫೮॥

೩೬೯

ಲೋಕವಿರಹಿತ ಶರಣ, ಶರಣವಿರಹಿತ ಲೋಕ.
ಹದಿನಾಲ್ಕು ಭುವನ ಒಬ್ಬ ಶರಣನ ಕುಕ್ಷಿಯೊಳಗು.
ಅರಿವು ಮರಹಿಲ್ಲದ ಘನವು
ಗುಹೇಶ್ವರಾ ನಿಮ್ಮ ಶರಣ. ॥೫೯॥

೩೭೦

ಇಹಲೋಕ ಪರಲೋಕ ತಾನಿರ್ದಲ್ಲಿ,
ಗಗನ ಮೇರುಮಂದಿರ ತಾನಿರ್ದಲ್ಲಿ,
ಸಕಲಭುವನ ತಾನಿರ್ದಲ್ಲಿ,
ಸತ್ಯ ನಿತ್ಯ ನಿರಂಜನ ಶಿವತತ್ವ ತಾನಿರ್ದಲ್ಲಿ,
ಅಂತರ ಮಹದಂತರ ತಾನಿರ್ದಲ್ಲಿ,
ಸ್ವತಂತ್ರ ಗುಹೇಶ್ವರಲಿಂಗ ತಾನಿರ್ದಲ್ಲಿ. ॥೬೦॥

೩೭೧

ಕೊಂಕಣ ದ್ವೀಪದಲ್ಲಿ ಒಂದು ಕಪಿ ಹುಟ್ಟಿತ್ತು
ತಪವ ಮಾಡುವ ಸಪ್ತ ಋಷಿಯರ ನುಂಗಿತ್ತು
ನವನಾಥಸಿದ್ಧರ ತೊತ್ತಳದುಳಿಯಿತ್ತು,
ಅರುಹಿರಿಯರ ತಲೆಯ ಮೆಟ್ಟಿ ಅರಿಯಿತ್ತು.
ಕಪಿಜನ ವೈರಿ ಸರ್ಪನ ಹೇಳಿಗೆಯಲ್ಲಿ ನಿದ್ರೆಗೆಯ್ಯಿತ್ತು.
ಯೋಗಿಗಳ ಭೋಗಿಗಳ ಕೊಲ್ಲದ ಕೊಲೆಯ ಕೊಂದಿತ್ತು.
ಕಾಮನ ಅರೆಯ ಮೆಟ್ಟಿ ಕೂಗಿತ್ತು,
ಕೋಳಿಯ ಹಂಜರನನಾಸಿಕ ಬೆಕ್ಕ ನುಂಗಿತ್ತು,
ಕೋಳಿಯ ಅರ್ಕಜದ ಅರಿವನರಿವ ಅರುಹಿರಿಯರ ಮಿಕ್ಕು ;
ಭಾವಸೊಕ್ಕನುಂಡು ಕೊಕ್ಕರನಾಯಿತ್ತು.
ಹಿಂದಿರ್ದ ಕೋಳಿಯ ಕೊಕ್ಕರನ ಕಪಿಯ, ಭಾವವ ಅರಿಯದಿರ್ದ ಕಾರಣ—

ಕೆದರಿದ ಚರಣ ಉಡುಗಿ, ಮರಣವರಿಯದೆ, ಕರಣದೇಹತ್ವವಿಲ್ಲದೆ,
ಲಿಂಗೈಕ್ಯ–ತಾನೆ ಪ್ರಾಣ ಪುರುಷ.
ಇದನರಿದು ನುಂಗಿದಾತನೆ ಪರಮಶಿವಯೋಗಿ–
ಭಂಗವರಿಯದ, ಜನನದ ಹೊಲಬರಿಯದ, ಭಾವದ ಜೀವವರಿಯದ !
–ಇದು ಕಾರಣ ನಿಮ್ಮ ಶರಣನು ಲಿಂಗಸ್ವಯಶಕ್ತಿಶರಣ ತಾನೆ. ॥೬೦॥

೩೭೨

ತನ್ನನರಿಯದ ಅರಿವೆಂತುಟೊ ? ತನ್ನ ಮರೆದ ಮರಹೆಂತುಟೊ ?
ಅರಿದವರು ಮರೆದವರು
ನಿಮ್ಮ ಪ್ರತಿಬಿಂಬದಂತಿಪ್ಪರು ಕಾಣಾ ಗುಹೇಶ್ವರಾ. ॥೬೨॥

೩೭೩

ಮಾಯಾಮಲಿನ ಮನದಿಂದಗಲದೆ,
ಕಾಯದ ದಂದುಗ ಕಳೆಯಿಂದಗಲದೆ,
ಅರಿವು ಬರಿದೆ ಬಪ್ಪುದೆ? ನಿಜವು ಬರಿದೆ ಸಾಧ್ಯವಪ್ಪುದೆ ?
ಮರುಳೆ, ಗುಹೇಶ್ವರಲಿಂಗವನರಿಯ ಬಲ್ಲಡೆ,
ನಿನ್ನ ನೀ ತಿಳಿದು ನೋಡಾ.

॥೬೩॥

೩೭೪

ಜ್ಞಾನಚಕ್ರ:
ಪರಮ ತತ್ವ ಪರಮಜ್ಞಾನ ಪರಮಾರ್ಥ ಪರಾಪರ
ವಾಙ್ಮನಕ್ಕಗೋಚರ ಶಬ್ದಗಂಭೀರ ಉಪಮಾತೀತ, ಉನ್ನತ ಪರಶಿವ,
ಜ್ಞಾನಜ್ಯೋತಿ ಸುಜ್ಞಾನದ ಪ್ರಭೆಯ ಬೆಳಗಿನೊಳಗೆ ಸುಳಿದಾಡುವ
ಪರಮಾನಂದದ ಮಹಾಮಹಿಮಂಗೆ,
ಶಿವಜ್ಞಾನವೆ ಶೃಂಗಾರ, ಮಹಾಬೆಳಗೆ ವಿಭೂತಿ, ಪಂಚಬ್ರಹ್ಮವೆ ದರ್ಶನ
ಗಗನಸ್ಥಾನವೆ ಕಂಥೆ, ಆಕಾಶವೆ ಟೊಪ್ಪರ,
ಅಜಾಂಡ–ಬ್ರಹ್ಮಾಂಡವೆ ಕರ್ಣಕುಂಡಲ,
ಆದಿ ಆಧಾರವೆ ಕಕ್ಷಪಾಳ ಅನಾಹತವೆ ಒಡ್ಯಾಣ, ಅದ್ವೈತವೆ ಯೋಗವಟ್ಟಿಗೆ,
ಅಗಮ್ಯವೆ ಯೋಗವಾವುಗೆ, ಅಚಲಿತವೆ ಖರ್ಪರ, ಅಪ್ರಾಮಣವೆ ಲಾಕುಳ,
ಅವಿಚಾರವೆ ಸುಳುಹು, ಅಕಲ್ಪಿತವೆ ಭಿಕ್ಷೆ, ಕೊಂಡುದೆ ಗಮನ, ನಿಂದುದೆ ನಿವಾಸ,–
ನಿಶ್ಚಿಂತವೆಂಬ ಆಶ್ರಮದಲ್ಲಿ ನಿರಾಕುಳವೆಂಬ ಸಿಂಹಾಸನವನಿಕ್ಕಿ;
ಗಗನಗಂಭೀರದ ಬಾವಿಯೊಳಗೆ ಅಗೋಚರದ ಅಗ್ಘಣಿಯ ತಂದು

ಮಹಾಘನಪ್ರಾಣಲಿಂಗಕ್ಕೆ ಮಂಗಳದ ಬೆಳಗಿನಲ್ಲಿ ಮಜ್ಜನಕ್ಕೆರೆದು;
ಬಿಂದ್ವಾಕಾಶವೆ ಗಂಧ, ಮಹದಾಕಾಶವೆ ಅಕ್ಷತೆ, ಪರಾಪರವೆ ಪತ್ರೆಪುಷ್ಪ,
ನಿರ್ಮಳವೆ ಲಿಂಗಾರ್ಚನೆ, ಮಹಾಪ್ರಕಾಶವೆ ಪೂಜೆ,
ನಿತ್ಯನಿರಂಜನವೆ ಧೂಪದೀಪಾರತಿ,
ಸಕಲ ಭುವನಾದಿಭುವನಂಗಳೆ ಸಯದಾನ, ಆಚಾರವೆ ಅರ್ಪಿತ, ಮಹತ್ವವೆ ಸಿತಾಳ,
ಅಖಂಡಿತವೆ ಅಡಕೆ, ಏಕೋಭಾವವೆ ಎಲೆ, ಶುದ್ಧ ಶಿವಾಚಾರವೆ ಸುಣ್ಣ –
ವಿವೇಕ ವಿಚಾರದಿಂದ ವೀಳೆಯವನವಧರಿಸೂದು.
ಮಹಾಲಿಂಗದ ಪರಿಣಾಮವೆ ಪ್ರಸಾದ, ಸಮ್ಯಕ್ ಜ್ಞಾನವೆ ಸಂತೋಷ.
ಸಹಜ ನಿರಾಭಾರಿಗಳ ಮೇಳದಿಂದ, ನಿಸ್ಸೀಮದ ನಿಭ್ರಾಂತಿನ ಸುಸಂಗದಲ್ಲಿ –
ನಿರಾಶಾಪದವೆ ಅನುಕೂಲ, ನಿಶ್ಶಬ್ದವೆ ಅನುಭಾವ,
ಅನುಪಮದ ನಿಶ್ಶೂನ್ಯವೆ ವಿಶ್ರಾಮ, ನಿರಾಕಾರವೆ ಗಮನ.
ನಿರಂತರ ಪಾತಾಳ ಊರ್ಧ್ವದ ಪವನ; – ತ್ರಿಭುವನಗಿರಿಯೆಂಬ ಪರ್ವತವನೇರಿ,
ಕಾಯವೆಂಬ ಕದಳಿಯ ಹೊಕ್ಕು ಸುಳಿದಾಡುವ
ಪರಮಾನಂದದ ಮಹಾಮಹಿಮಂಗೆ:
ಇಹಲೋಕವೇನು ? ಪರಲೋಕವೇನು ? –
ಅಲ್ಲಿಂದತ್ತ ಆಗಮ್ಯ ನಿರಾಳ ಪರಮಜ್ಞಾನದ ಸಿದ್ಧಿ ಮಹಾಲಿಂಗದ ಬೆಳಗು.
ಗುಹೇಶ್ವರಾ, ನಿಮ್ಮ ನಿಜವನರಿದ ಮಹಾಮಹಿಮ ಶರಣಂಗೆ.
ನಮೋ ನಮೋ ಎಂಬೆನು. ॥೬೪॥

೩೭೫

ಊರದ ಚೇಳಿನ ಏರದ ಬೇನೆಯಲ್ಲಿ, ಮೂರುಲೋಕವೆಲ್ಲಾ ನರಳಿತ್ತು !
ಹುಟ್ಟದ ಗಿಡುವಿನ ಬಿಟ್ಟ ಎಲೆಯ ತಂದು ಮುಟ್ಟದೆ ಹೂಸಲು:
ಮಾಬುದು – ಗುಹೇಶ್ವರಾ. ॥೬೫॥

೩೭೬

ನಿಮ್ಮಲ್ಲಿ ನೀವು ತಿಳಿದು ನೋಡಿದರೆ: ಅನ್ಯವಿಲ್ಲ ಕಾಣಿರಣ್ಣಾ.
ಅರಿವು ನಿಮ್ಮಲ್ಲಿಯೆ ತದ್ಗತವಾಗಿಯದೆ.
ಅನ್ಯಭಾವವ ನೆನೆಯದೆ ತನ್ನೊಳಗೆ ತಾನೆಚ್ಚರಬಲ್ಲಡೆ
ತನ್ನಲ್ಲಿಯೆ ತನ್ಮಯವು ಗುಹೇಶ್ವರಲಿಂಗವು. ॥೬೬॥

೩೭೭

ಜಗದಗಲದಲ್ಲಿ ಹಬ್ಬಿದ ಬಲೆ, ಯುಗಜುಗಕ್ಕೆ ತೆಗೆಯದು ನೋಡಾ !
[ಅದು] ಬಗೆಯಲ್ಲಿ ಭ್ರಮೆಗೊಳ್ಳದು;–ತನ್ನ ಇರವಿನ ಪರಿ ಇಂತುಟಾಗಿ !
ಜಗದ ಪ್ರಾಣಿಗಳುಲಿದುಲಿದು ಮರಳಿ ಮತ್ತಲ್ಲಿಯೆ ಬೀಳಲು;
ಬಲೆಯ ನೇಣು ಬಗ್ಗುರಿಯ ಕೈಯಲಿರಲು.–
ಬಲೆಯ ನೇಣ ಕಣ್ಣಿ ಕಳಚಿ,
ಲಿಂಗಕ್ಕೆ ಪ್ರಾಣ ಶರಣೆನ್ನುತ್ತವೆ ನಿಂದು,
ಒಡಲುಪಾಧಿಯನರಿಯದೆ ಬೆಳಗಿನಲ್ಲಿ ನಿಂದು,
ಬೇಡಿದವರಿಗೆ ಅಣಿಮಾದಿ ಗುಣಂಗಳನಿತ್ತು,
ಮನೋಮಧ್ಯದಲ್ಲಿ ನಿಲಿಸಿ ಸೆಸೆವೃತ್ತಿರ್ದು ಸುಖಿಯಾದ;
ಪ್ರಾಣನಾಥನ ಕಾಯ ಶೂನ್ಯಲಿಂಗಕ್ಕೆ, ಪ್ರಾಣಶೂನ್ಯಶರಣ.
ಗುಹೇಶ್ವರಲಿಂಗವ ಬೆರಸಿ ಬೇರಿಲ್ಲ. ॥೬೭॥

೩೭೮

ಇಲ್ಲವೆಯ ಮೇಲೊಂದು ಉಂಟೆಂಬ ಪರಿಭಾವ,
ಅಲ್ಲಿ ಇಲ್ಲಿ ಎನ್ನದೆ ತಾನೆ ನಿಂದಿತ್ತು ನೋಡಾ !
ತನ್ನಲ್ಲಿಯ ಪ್ರಕೃತಿಯ ತಾನೆ ಹಿಂಗಿಸಲು;
ಅಲ್ಲಿಯೆ ಜ್ಞಾನ ಉದಯಿಸಿತ್ತು !
ಎಲ್ಲಾ ಎಡೆಯಲ್ಲಿ ನಿಂದ ನಿಜಪದವ
ಗುಹೇಶ್ವರಾ ನಿಮ್ಮ ಶರಣ ಬಲ್ಲ. ॥೬೮॥

೩೭೯

ಒಡಲಲ್ಲಿ ಹುಟ್ಟಿತ್ತು ಭ್ರಮೆಯಿಂದ ಬೆಳೆಯಿತ್ತು.
ಒಡನೆ ಹುಟ್ಟಿತ್ತು ತನ್ನನರಿಯದ ಕಾರಣ.
ಇದು ಒಂದು ಸೋಜಿಗವ ಕಂಡೆ.
ಕೂಡೆ ಭರಿತವೆಂದರಿಯಲು ಅಂಗದಲಳವಟ್ಟಿತ್ತು ಗುಹೇಶ್ವರಾ. ॥೬೯॥

೩೮೦

ಭವವಿರಹಿತಂಗೆ ಭಕ್ತಿಯ ಮಾಡುವರು ನೀವು ಕೇಳಿರಣ್ಣಾ.
ಭವದ ಬಾಧೆಯೊಳಗೆ ನೀವಿದ್ದು ಅಭವಭಕ್ತಿಯ ಮಾಡುವ ಪರಿಯಂತೊ ?
ತಾನಭವನಾದಲ್ಲದೆ ಸಹಜಭಕ್ತಿಯ ಮಾಡಬಾರದು ಗುಹೇಶ್ವರಾ. ॥೭೦॥

೩೮೧

ಭವಿಯ ಕಳೆದೆವೆಂಬ ಮರುಳು ಜನಂಗಳು ನೀವು ಕೇಳಿರೆ;
ಭವಿಯಲ್ಲವೆ ನಿಮ್ಮ ತನುಗುಣಾದಿಗಳು ?
ಭವಿಯಲ್ಲವೆ ನಿಮ್ಮ ಮನಗುಣಾದಿಗಳು ?
ಭವಿಯಲ್ಲವೆ ನಿಮ್ಮ ಪ್ರಾಣಗುಣಾದಿಗಳು ?
ಇವರೆಲ್ಲರೂ ಭವಿಯ ಹಿಡಿದು ಭವಭಾರಿಗಳಾದರು.
ನಾನು ಭವಿಯ ಪೂಜಿಸಿ ಭವಂನಾಸ್ತಿಯಾದೆನು ಗುಹೇಶ್ವರಾ. ॥೭೧॥

೩೮೨

ಭವಿಬೀಜವೃಕ್ಷದ ಫಲದೊಳಗೆ, ಭಕ್ತಿಬೀಜವೃಕ್ಷ ಪಲ್ಲವಿಸಿತ್ತು !
ಭಕ್ತಿಬೀಜವೃಕ್ಷದ ಫಲದೊಳಗೆ, ಶರಣಬೀಜವೃಕ್ಷ ಪಲ್ಲವಿಸಿತ್ತು !
ಶರಣಬೀಜವೃಕ್ಷದ ಫಲದೊಳಗೆ;
ಕುಲನಾಶಕನಾದ ಶರಣ ಒಂದೆ ಬಸುರಲ್ಲಿ ಬಂದ–
ಬಂದು, ಬಳಗಕ್ಕೆ ತನ್ನ ಕುಲಕ್ಕೆ ತಾನೆ ಮಾರಿಯಾದ ಶರಣ.
ಭವಿಭಕ್ತ ಭವಿಬೀಜವೃಕ್ಷದ ತಂಪು ನೆಳಲ ಬಿಟ್ಟು,
ಕುಳ್ಳಿರ್ದಲ್ಲಿಯೆ; ಬಳಿ ಬಳಿಯೆ ಬಯಲಾದ ಶರಣ !
[ನಾದ] ಬಿಂದು ಬೀಜವಟ್ಟ ಹಾಳಾಗಿ ಹಾರಿಹೋದಲ್ಲಿ; ಇನ್ನೇನ ಹೇಳಲುಂಟು ?
ಗುಹೇಶ್ವರನೆಂಬ ಲಿಂಗವನರಿದು ಭವಿಗೆ ಭವಿಯಾದಾತಂಗೆ
ಇನ್ನೇನು ಪಥ (ಪದ?)ವುಂಟಯ್ಯಾ ? ॥೭೨॥

೩೮೩

ಹುಟ್ಟಿದ ಕೂಸಿಂಗೆ ಪಟ್ಟವ ಕಟ್ಟಿ, ವಿಭೂತಿಯ ಹೂಸಿ,
ಲಿಂಗವ ತೋರಿ – 'ಜೋಜೋ' ಎಂದು
ಜೋಗುಳವಾಡಿದಳು ಮಾಯಾದೇವಿಯಕ್ಕ !
'ಜೋಜೋ' ಎಂಬ ಸರ ಹರಿದು ತೊಟ್ಟಿಲು ಬಿದ್ದಿತ್ತು,
ಕೂಸು ಸತ್ತಿತ್ತು; ಗುಹೇಶ್ವರನುಳಿದನು ! ॥೭೩॥

೩೮೪

ಅರಿವಿನಲ್ಲಿ ಉದಯಿಸಿ ಮರಹು ನಷ್ಟವಾಗಿರ್ದ
ಶರಣನ ಪರಿಯನರಸಲುಂಟೆ ? ಗತಿಯ ಹೇಳಲುಂಟೆ ?
ಶಿಶು ಕಂಡ ಕನಸಿನಂತಿಪ್ಪರು ಗುಹೇಶ್ವರಾ ನಿಮ್ಮ ಶರಣರು ! ॥೭೪॥

೩೮೫

ಗುರುಶಿಷ್ಯಸಂಬಂಧಕ್ಕೆ ಲಿಂಗವ ಧರಿಸುವರಯ್ಯಾ.
ನಿಮ್ಮ ಬಂಧನಕ್ಕಿಕ್ಕಿ ಆಳುವರಯ್ಯಾ.
ಆನು ಕಂಡು ಮರುಗಿ 'ಅಕಟಕಟಾ' ಎಂದೆನಲ್ಲಾ !
ಕೂಗಿಲ್ಲ ಬೊಬ್ಬೆಯಿಲ್ಲ ಹೋದ ಹೊಲಬನರಿಯರು
ದೇವಾ ಗುಹೇಶ್ವರಾ ಬಾಳುದಲೆಯ ಹಿಡಿದೆನು. ॥೭೫॥

೩೮೬

ಕಾಯದಲ್ಲಿ ಕಳವಳವೆಡೆಗೊಂಡ ಬಳಿಕ,
ಅರಿವಿನಲ್ಲಿ ಮರವೆ ತಾನೆ ನಿಂದಿತ್ತು ನೋಡಾ.
ಕಾಯದ ಕಳವಳವ ವಾಯುವೆಂದರಿಯ ಬಲ್ಲಡೆ
ದೇವ ಗುಹೇಶ್ವರನ ನಿಲುವು ತಾನೆ ನೋಡಾ. ॥೭೬॥

೩೮೭

ಬಿಸಿಲೆಂಬ ಗುರುವಿಂಗೆ ನೆಳಲೆಂಬ ಶಿಷ್ಯ.
ನಿರಾಳಲಿಂಗಕ್ಕೆ ಬಯಲೆ ಸೆಜ್ಜೆ, ವಾಯುವೆ ಶಿವದಾರ,
ಬೆಳಗೆ ಸಿಂಹಾಸನ.
ಅತ್ತಲಿತ್ತ ಚಿತ್ತವ ಹರಿಯಲೀಯದೆ,
ಮಜ್ಜನಕ್ಕೆರೆದು ಸುಖಿಯಾದೆ ಗುಹೇಶ್ವರಾ. ॥೭೭॥

೩೮೮

ಕರಣಾದಿ ಗುಣಂಗಳಳಿದು ನವಚಕ್ರಂಗಳು ಭಿನ್ನವಾದ ಬಳಿಕ
ಇನ್ನೇನೊ? ಇನ್ನೇನೊ?
ಪುಣ್ಯ–ಪಾಪವಿಲ್ಲ ಇನ್ನೇನೊ ? ಇನ್ನೇನೊ ?
ಸ್ವರ್ಗ–ನರಕವಿಲ್ಲ ಇನ್ನೇನೊ ? ಇನ್ನೇನೊ ?
ಗುಹೇಶ್ವರಲಿಂಗವ ವೇಧಿಸಿ ಸುಖಿಯಾದ ಬಳಿಕ
ಇನ್ನೇನೊ ? ಇನ್ನೇನೊ ? ॥೭೮॥

೩೮೯

ಪೃಥ್ವಿಯನತಿಗಳೆದ ಸ್ಥಾವರಂಗಳಿಲ್ಲ;
ಅಪ್ಪುವನತಿಗಳೆದ ತೀರ್ಥಯಾತ್ರೆಗಳಿಲ್ಲ.
ಅಗ್ನಿಯನತಿಗಳೆದ ಹೋಮ ಸಮಾಧಿಗಳಿಲ್ಲ.

ವಾಯುವನತಿಗಳೆದ ನೇಮನಿತ್ಯಂಗಳಿಲ್ಲ.
ಆಕಾಶವನತಿಗಳೆದ ಧ್ಯಾನ ಮೌನಂಗಳಿಲ್ಲ.
ಗುಹೇಶ್ವರನೆಂದರಿದವಂಗೆ ಇನ್ನಾವಂಗವೂ ಇಲ್ಲ. ॥೭೯॥

೩೯೦

ಪೃಥ್ವಿ ಜಡನೆಂದರಿದವಂಗೆ ಸ್ಥಾವರಾದಿಗಳಲ್ಲಿ ಎರಗಲೇಕಯ್ಯಾ ?
ಅಪ್ಪು ಜಡನೆಂದರಿದವಂಗೆ ತೀರ್ಥಸ್ನಾನಂಗಳಲ್ಲಿ ಅತಿಶಯವೇಕಯ್ಯಾ ?
ತೇಜ ಜಡನೆಂದರಿದವಂಗೆ ಹೋಮ ಸಮಾಧಿಗಳೇಕಯ್ಯಾ ?
ವಾಯು ಜಡನೆಂದರಿದವಂಗೆ ಧ್ಯಾನ ಮೌನಂಗಳ ಹಿಡಿಯಲೇಕಯ್ಯಾ ?
ಆಕಾಶ ಜಡನೆಂದರಿದವಂಗೆ ಮಂತ್ರ(ತ್ರಾ ?)ರೂಢಿ ಏಕಯ್ಯಾ ?
ಇನಿತೂ ಜಡನೆಂದರಿದವಂಗೆ ವಿಧಿ ಕಿಂಕರತೆ ಇಲ್ಲವಯ್ಯಾ ?
ಗುಹೇಶ್ವರನ ನಿಜವು ಇದು ತಾನೆಂದರಿದ ಮಹಾತ್ಮಂಗೆ. ॥೮೦॥

೩೯೧

ಬಂದ ಬಟ್ಟೆಯ ನಿಂದು ನೋಡಲೊಲ್ಲೆ ಕಂದಾ,
ಅದೇನು ಸೋಜಿಗವೊ ? ಬಿಂದು ಛಂದವಲ್ಲ
ಬಂದ ಪರಿಯನು ಗುಹೇಶ್ವರ ಬಲ್ಲ ಕಂದಾ. ॥೮೧॥

೩೯೨

ಪೃಥ್ವಿಯಲೊದಗಿದ ಘಟವು ಪೃಥ್ವಿಯಲಡಗಿದಡೆ
ಆ ಪೃಥ್ವಿಯ ಚರಿತ್ರವೆ ಚರಿತ್ರ ನೋಡಾ !
ಅಪ್ಪುವಿನಲೊದಗಿದ ಘಟವು ಅಪ್ಪುವಿನಲಡಗಿದಡೆ
ಆ ಅಪ್ಪುವಿನ ಚರಿತ್ರವೆ ಚರಿತ್ರ ನೋಡಾ !
ತೇಜದಲೊದಗಿದ ಘಟವು ತೇಜದಲಡಗಿದಡೆ
ಆ ತೇಜದ ಚರಿತ್ರವೆ ಚರಿತ್ರ ನೋಡಾ !
ವಾಯುವಿನಲೊದಗಿದ ಘಟವು ವಾಯುವಿನಲಡಗಿದಡೆ
ಆ ವಾಯುವಿನ ಚರಿತ್ರವೆ ಚರಿತ್ರ ನೋಡಾ !
ಆಕಾಶದಲೊದಗಿದ ಘಟವು ಆಕಾಶದಲಡಗಿದಡೆ
ಆ ಆಕಾಶದ ಚರಿತ್ರವೆ ಚರಿತ್ರ ನೋಡಾ !
ಗುಹೇಶ್ವರನೆಂಬ ಲಿಂಗದಲೊದಗಿದ ಘಟವು ಲಿಂಗದಲಡಗಿದಡೆ.
ಆ ಲಿಂಗದ ಚರಿತ್ರವೆ ಚರಿತ್ರ ನೋಡಾ. ॥೮೨॥

೩೯೩

ಸಕಲ ಭುವನಾದಿಭುವನಂಗಳಿಗೆ ತಂದೆ, ಸಕಲದೇವಾಧಿದೇವರ್ಕಳಿಗೆ ತಂದೆ.
ಭವಭವದಲ್ಲಿ ನೀನೆನ್ನ ತಂದೆ.
ಗುಹೇಶ್ವರಲಿಂಗ. ನಿರಾಳದಲ್ಲಿ ನೀನೆನ್ನ ತಂದೆ. ॥೮೩॥

೩೯೪

ಬಟ್ಟೆಗೊಂಡು ಹೋಗುತ್ತೊಂದ ಕೊಟ್ಟುಹೋದರೆಮ್ಮವರು.
ಎಲ್ಲಿಯದು ಲಿಂಗ ಎಲ್ಲಿಯದು ಜಂಗಮ ?
ಎಲ್ಲಿಯದು ಪಾದೋದಕ ಪ್ರಸಾದವಯ್ಯಾ ?
ಅಲ್ಲದವರೊಡನಾಡಿ ಎಲ್ಲರೂ ಮುಂದುಗೆಟ್ಟರಯ್ಯಾ.
ಆನು ನಿಮ್ಮ ನಂಬಿ ಬಯಲಾದೆ ಗುಹೇಶ್ವರಾ. ॥೮೪॥

೩೯೫

ಆದಿಯ ಶರಣನೊಬ್ಬನ ಮದುವೆಯ ಮಾಡಲು.
ಯುಗ ಜುಗದವರೆಲ್ಲಾ ನಿಬ್ಬಣ ಹೋದರು.
ಹೋದ ನಿಬ್ಬಣಿಗರು ಮರಳರು !
ಮದುವಣಿಗನ ಸುದ್ದಿಯನರಿಯಲು ಬಾರದು.
ಹಂದರವಳಿಯದು. ಹಸೆ ಮುನ್ನಲುಡುಗದು !
ಬಂದಬಂದವರೆಲ್ಲಾ ಮಿಂದುಂಡು ಹೋದರು.
[ಇದರಂತುವನರಿಯದೆ ಜಗವೆಲ್ಲ ಬರಡಾಯಿತ್ತು]
ಇದರಂತುವನರಿದಡೆ–
ಗುಹೇಶ್ವರಶಬ್ದವನೊಳಕೊಂಡ ಮಹಂತ ಬಯಲು ! ॥೮೫॥

೩೯೬

ಮರನೊಳಗಣ ಕಿಚ್ಚು ಮರನಸುಟ್ಟಂತಾದೆನಯ್ಯಾ.
ಬಯಲ ಗಾಳಿಯ ಪರಿಮಳ ನಾಸಿಕವನಪ್ಪಿದಂತಾದೆನಯ್ಯಾ.
ಕರುವಿನ ಬೊಂಬೆಯುನುರಿಯುಂಡಂತಾದೆನಯ್ಯಾ.
ಗುಹೇಶ್ವರನೆಂಬ ಲಿಂಗವ ಪೂಜಿಸಿ ಭವಗೆಟ್ಟೆನಯ್ಯಾ. ॥೮೬॥

೩೯೭

ಐವರ ಸಂಗದಿಂದ ಬಂದೆ ನೋಡಯ್ಯಾ.
ಐವರ ಸಂಗದಿಂದ ನಿಂದೆ ನೋಡಯ್ಯಾ.
ಈ ಐವರೂ ತಮ್ಮ ತಮ್ಮ ಬಟ್ಟೆಯಲ್ಲಿ ಹೋದರು.
ನಾನೊಬ್ಬನೆ ನಿಸ್ಸಂಗಿಯಾಗಿ ಉಳಿದೆನಲ್ಲಾ !
ಗುಹೇಶ್ವರನೆಂಬ ನಿತ್ಯನಿರಂಜನ ರೂಹಿಲ್ಲದ ಘನವ ಕಂಡೆನಯ್ಯಾ. ॥೮೭॥

೩೯೮

ಸಟೆ ದಿಟವಾದಲ್ಲಿ ಮುಟ್ಟಿಯೂ ಮುಟ್ಟದೆ ಇರಬೇಕು.
ಅತಿರತಿ ಗತಿಮತಿಗೆ ಮಂದವಾಯಿತ್ತು.
ಎಂಟು ಹಿಟ್ಟು ಪಂಚಮಠವುಂಟು ಧರೆಯ ಮೇಲೆ.
ನರಸುರಾದಿಗಳೆಲ್ಲ ಸಭಾರವ ಹೊತ್ತು ಬಂದೈದಾರೆ.
ಹಿಟ್ಟು ನಷ್ಟ, ಮಠ ಹಾಳು, ಊರಿಗುಪಟಳ,
ಮಠವ ಸುಟ್ಟು ಗಹೇಶ್ವರ ಬೀದಿಗರುವಾದ. ॥೮೮॥

೩೯೯

ಮತಿಯೊಳಗೊಂದು ದುರ್ಮತಿ ಹುಟ್ಟಿದ ಬಳಿಕ;
ಮತಿಯ ಮರವೆಯೊಳಕೊಂಡು,
ಭವಕ್ಕೆ ಗುರಿಮಾಡಿ ಕೆಡಹಿತ್ತು ನೋಡಾ.
ಅಖಂಡಿತವ ತಂದು ಮತಿಯೊಳಗೆ ವೇದಿಸಲು,
ಗತಿಗೆಟ್ಟು ನಿಂದಿತ್ತು ಗುಹೇಶ್ವರಾ. ॥೮೯॥

೪೦೦

ತಲೆಯಿಲ್ಲದ ಅಟ್ಟೆ ಜಗವ ನುಂಗಿತ್ತು.
ಅಟ್ಟೆಯಿಲ್ಲದ ತಲೆ ಆಕಾಶವ ನುಂಗಿತ್ತು.
ಅಟ್ಟೆ ಬೇರೆ, ತಲೆ ಬೇರಾದಡೆ–ಮನ ಸಂಚಲಿಸುತ್ತಿದ್ದಿತ್ತು !
ಅಟ್ಟೆಯನೂ ತಲೆಯನೂ ಬಯಲು ನುಂಗಿದಡೆ,
ಅನು ನುಂಗಿದೆನು ಗುಹೇಶ್ವರನಿಲ್ಲದಂತೆ ! ॥೯೦॥

೪೦೧

ಅಹಂಕಾರವನೆ ಮರೆದು, ದೇಹಗುಣಂಗಳನೆ ಜರೆದು,
ಇಹ ಪರವು ತಾನೆಂದರಿದ ಕಾರಣ, ಸೋಹಂ ಭಾವ ಸ್ಥಿರವಾಯಿತ್ತು.

ಸಹಜದುದಯದ ನಿಲವಿಂಗೆ,
ಮಹಾಘನಲಿಂಗದ ಬೆಳಗು ಸ್ವಾಯತವಾದ ಕಾರಣ
ಗುಹೇಶ್ವರಾ ನಿಮ್ಮ ಶರಣನು ಉಪಮಾತೀತನು. ॥೯೧॥

೪೦೨

ಕಾಯ ಭಿನ್ನವಾಯಿತ್ತೆಂದು ಮುಟ್ಟಿಸುವರು ಲಿಂಗವನು.
ಮುಟ್ಟಲಾಗದು ಲಿಂಗವನು; ಮುಟ್ಟಿದಾತ ಮುಂದೆ ಹೋದ.
ಮುನ್ನ ಮುಟ್ಟಿದವರೆಲ್ಲ ಉಪಜೀವಿಗಳಾದರು.
ಇನ್ನು ಮುಟ್ಟಿದವರಿಗೆ ಗತಿಯುಂಟೆ ಗುಹೇಶ್ವರಾ ? ॥೯೨॥

೪೦೩

ಬಿತ್ತದೆ ಬೆಳೆಯದೆ ತುಂಬಿದ ರಾಶಿಯ ಕಂಡಲ್ಲಿ
ಸುಖಿಯಾಗಿ ನಿಂದವರಾರೊ ?
ಇದ, ಹೇಳಲೂ ಬಾರದು ಕೇಳಲೂ ಬಾರದು.
ಗುಹೇಶ್ವರಾ ನಿಮ್ಮ ಶರಣನು,
ಲಚ್ಚಣವಳಿಯದೆ ರಾಶಿಯನಳೆದನು. ॥೯೩॥

೪೦೪

ಅಂತರಂಗದಲ್ಲಿ ಭವಿಯನೊಳಕೊಂಡು, ಬಹಿರಂಗದಲ್ಲಿ ಭಕ್ತಿಯನೊಳಕೊಂಡು,
ಆತ್ಮಸಂಗದಲ್ಲಿ ಪ್ರಸಾದವನೊಳಕೊಂಡು, ಇಪ್ಪ ಭಕ್ತರ ಕಾಣೆನಯ್ಯಾ ನಾನು,
ಇಂತಪ್ಪ ಲಿಂಗೈಕ್ಯರ ಕಾಣೆನಯ್ಯಾ.
ಅಂತರಂಗದಲ್ಲಿ ಸುಳಿದಾಡುವ ತನುಗುಣಾದಿಗಳ, ಮನಗುಣಾದಿಗಳ,
ಪ್ರಾಣಗುಣಾದಿಗಳ ಕಳೆದಲ್ಲಿ ಶರಣರಹರೆ ?
ತನು ಮನ ಧನವ ಕೊಟ್ಟಲ್ಲಿ ಭಕ್ತರಹರೆ ?
ಉಂಬವರ ಕಂಡು ಕೈನೀಡಿದಡೆ ಪ್ರಸಾದಿಗಳಹರೆ ?
ಅಂತರಂಗ ಬಹಿರಂಗ ಆತ್ಮಸಂಗ – ಈ ತ್ರಿವಿಧದ ಭೇದವ
ಗುಹೇಶ್ವರಾ ನಿಮ್ಮ ಶರಣ ಬಲ್ಲ. ॥೯೪॥

೪೦೫

ಲೋಕದ ನಚ್ಚು ಮಚ್ಚು ಬಿಟ್ಟು ನಿಶ್ಚಿಂತವಾಯಿತ್ತು.
ಏನು ಹತ್ತಿತ್ತೆಂದರಿಯೆನಯ್ಯಾ.
ಏನು ಹೊಂದಿ(ಹೊದ್ದಿ?)ತ್ತೆಂದರಿಯೆನಯ್ಯಾ.

ಗುಹೇಶ್ವರನೆಂಬ ಗ್ರಹ ಒಳಕೊಂಡಿತ್ತಾಗಿ
ನಾನೇನೆಂದರಿಯೆನಯ್ಯಾ. ||೯೫||

೪೦೬

ಧರೆಯ ಮೇಲಣ ಜನಿತಕ್ಕೆ ಉರಗನ ಅಧರಪಾನ.
ನಖಕಂಕಣ (ನ ಖ ಕಂ ಕ ಣ ?) ಮುಖ ಮೂವತ್ತೊಂದು ಶಿರವ ನುಂಗಿತ್ತು ನೋಡಾ !
ಉತ್ತರಾಪಥದ ಕೊಡಗೂಸು ಈಶಾನ್ಯದ ಒಡಲೊಳಗೆ ಅಡಗಿ.
ಸಾಕಾರದ ಸಂಗವ ನುಂಗಿದ ಭಾಷೆಯನರಿಯದ ಮುಗ್ಧೆ !
ಅರಿವಿನೊಳಗಣ ಮರಹು. ಮರಹಿನೊಳಗಣ ಅರಿವು
ಗುಹೇಶ್ವರಲಿಂಗವು ತ್ರಿಕಾಲ ಪೂಜೆಯ ನುಂಗಿತ್ತು. ||೯೬||

೪೦೭

ಊರಕ್ಕಿ ಊರೆಣ್ಣೆ:– 'ಮಾರಿಕವ್ವ ತಾಯೆ ಬಾರೆ.
ಕುಮಾರನ ತಲೆಗಾಯಿ' ಎಂಬಂತೆ:
ಕಾಡ ಹೂ ಕೈಯ ಲಿಂಗವ ಪೂಜಿಸುವಾತನ ಭಕ್ತನೆಂಬರು. ಅಲ್ಲ.
ತಾನು ಲಿಂಗ ತನ್ನ ಮನವೆ ಪುಷ್ಪ.
ಪೂಜೆಯ ಪೂಜಿಸುವಾತನೆ ಸದ್ಭಕ್ತನು– ಗುಹೇಶ್ವರಾ. ||೯೭||

೪೦೮

ವಾಯದ ಪಿಂಡಿಗೆ ವಾಯದ ದೇವರಿಗೆ
ವಾಯಕ್ಕೆ ಕಾಯವ ಬಳಲಿಸದೆ ಪೂಜಿಸಿರೊ.
ಕಟ್ಟುಗೂಂಟಕ್ಕೆ ಬಂದ ದೇವರ ಪೂಜಿಸಲು.
ಸೂಜಿಯ ಪೋಣಿಸಿ ದಾರವ ಮರೆದಡೆ
ಹೊಲಿಗೆ ಬಿಚ್ಚಿತ್ತು ಗುಹೇಶ್ವರಾ. ||೯೮||

೪೦೯

ಭಿತ್ತಿ ಮೂರರ ಮೇಲೆ ಚಿತ್ರ ಬರೆಯಿತ್ತು:
ಪ್ರಥಮ ಭಿತ್ತಿಯ ಚಿತ್ರ ಚಿತ್ರದಂತೆ ಇದ್ದಿತ್ತು:
ಎರಡನೆಯ ಭಿತ್ತಿಯ ಚಿತ್ರ ಹೋಗುತ್ತ ಬರುತ್ತ ಇದ್ದಿತ್ತು.
ಮೂರನೆಯ ಭಿತ್ತಿಯ ಚಿತ್ರ ಹೋಯಿತ್ತು ಮರಳಿ ಬಾರದು.
ಗುಹೇಶ್ವರಾ– ನಿಮ್ಮ ಶರಣ ತ್ರಿವಿಧದಿಂದತ್ತತ್ತಲೆ ! ||೯೯||

೪೧೦

ಅಂಗದ ಮೇಲೆ ಲಿಂಗಸಂಬಂಧವಾದ ಬಳಿಕ,
ಪ್ರಾಣದ ಮೇಲೆ ಜ್ಞಾನ ನಿರ್ಧಾರವಾಯಿತ್ತು ನೋಡಾ.
ಒಳಹೊರಗೆಂಬ ಉಭಯವು ಏಕಾರ್ಥವಾಯಿತ್ತು.
ಗುಹೇಶ್ವರಾ ನಿಮ್ಮ ನೆನೆವೆನಾಗಿ. ॥೧೦೦॥

೪೧೧

ಹಿಂದೆ ಮುನ್ನೂರರವತ್ತು ಸಾವಿರ ಯುಗ ಹೋಯಿತ್ತು.
ಮುಂದೆ ಮುನ್ನೂರರವತ್ತು ಸಾವಿರ ಯುಗ ಹೋಯಿತ್ತು.
ಇನ್ನೂ ಕೊಯ್ದಾನೆ ಪುಷ್ಪಂಗಳನು.
ಉನ್ನತನೆಂಬ ಗಣೇಶ್ವರನ ಕರಡಗೆ ತುಂಬದು ನೋಡಾ !
ಇನ್ನೂ ಕೊಯ್ದಾನೆ ಪುಷ್ಪಂಗಳನು — ಆ ಕುಲಗಿರಿಗೆ ಮೇರುಗಿರಿ ಘನವೆಂದರಿಯರು.
ಗುಹೇಶ್ವರಾ, ನಿಮ್ಮ ಮಹಿಮೆಯ ಹರಿಬ್ರಹ್ಮಾದಿಗಳೂ ಅರಿಯರು. ॥೧೦೧॥

೪೧೨

ಮಹಾಮೇರುವಿನ ಮರೆಯಲ್ಲಿರ್ದು,
ಭೂತದ ನೆಳಲನಾಚರಿಸುವ ಕರ್ಮಿ, ನೀ ಕೇಳಾ,
ಆ ಮಹಾಲಿಂಗಕ್ಕೆ ಮಜ್ಜನವೆಂದೇನೊ ?
ಪರಿಮಳಲಿಂಗಕ್ಕೆ ಪತ್ರಪುಷ್ಪಗಳೆಂದೇನೊ ?
ಜಗಜ್ಯೋತಿಲಿಂಗಕ್ಕೆ ಧೂಪದೀಪಾರತಿಗಳೆಂದೇನೊ ?
ಅಮೃತಲಿಂಗಕ್ಕೆ ಆರೋಗಣೆಯೆಂದೇನೊ ?
ಗುಹೇಶ್ವರಲಿಂಗದಂತುವ ಬಲ್ಲವರಾರೊ ? ॥೧೦೨॥

೪೧೩

ಹೂ ಕೊಯ್ಯಹೋದಡೆ ಹೂ ದೊರಕೊಳ್ಳದು.
ಅಗ್ಘವಣಿಯ ತುಂಬುವಡೆ ಅಗ್ಘವಣಿ ತುಂಬದು.
ಪೂಜಿಸ ಹೋದಡೆ ಪೂಜೆ ನೆಲೆಗೊಳ್ಳದು. —
ಇದೇನು ಸೋಜಿಗವೊ ಅಯ್ಯಾ !
ಅರಿದು ಮರೆದವನಲ್ಲ, ಬೆರಗು ಹಿಡಿದವನಲ್ಲ.
ಗುಹೇಶ್ವರನೆಂಬ ಬುದ್ಧಿ ಇಂತುಟು. ॥೧೦೩॥

೪೧೪

ಶರಣ, ಲಿಂಗಾರ್ಚನೆಯ ಮಾಡಲೆಂದು ಪುಷ್ಪಕ್ಕೆ ಕರವ ನೀಡಿದಡೆ,
ಆ ಪುಷ್ಪ ನೋಡ ನೋಡ ಕರದೊಳಡಗಿತ್ತಲ್ಲಾ !
ಅದು ಓಗರದ ಗೊಬ್ಬರವ ನುಣ್ಣದು;
ಕಾಮದ ಕಣ್ಣರಿಯದು, ನಿದ್ರೆಯ ಕಪ್ಪೊತ್ತದು.
ಅದು ಅರುಣ ಚಂದ್ರ[ರ] ತೆರೆಯಲ್ಲಿ ಬೆಳೆಯದು.
ಲಿಂಗವೇದಿಯಾಗಿ ಬೆಳೆದ ಪುಷ್ಪವನು
ಗುಹೇಶ್ವರಾ ನಿಮ್ಮ ಶರಣನು ಪ್ರಾಣಲಿಂಗಕ್ಕೆ ಪೂಜೆಯ ಮಾಡಿದನು. ॥೧೦೪॥

೪೧೫

ಗಗನವೆ ಗುಂಡಿಗೆ ಆಕಾಶವೆ ಅಗ್ಘವಣಿ,
ಚಂದ್ರ, ಸೂರ್ಯರಿಬ್ಬರು ಪುಷ್ಪ, ಬ್ರಹ್ಮ ಧೂಪ, ವಿಷ್ಣು ದೀಪ,
ರುದ್ರನೋಗರ ! – ಸಯಧಾನ ನೋಡಾ !
ಗುಹೇಶ್ವರಲಿಂಗಕ್ಕೆ ಪೂಜೆ ನೋಡಾ ! ॥೧೦೫॥

೪೧೬

ಸರೋವರದ ಕಮಲದಲ್ಲಿ ತಾನಿಪ್ಪನು,
ಕೆಂದಾವರೆಯ ಪುಷ್ಪದ ನೇಮವೆಂತೊ?
ಹೂವ ಮುಟ್ಟದೆ ಕೊಯ್ವ ನೇಮವೆಂತೊ?
ಮುಟ್ಟದೆ ಕೊಯ್ವ ಮುಟ್ಟದ ಪರಿಮಳ
ಗುಹೇಶ್ವರಾ ನಿಮ್ಮ ಶರಣನು. ॥೧೦೬॥

೪೧೭

ಹೊರಗನೆ ಕೊಯ್ದು ಹೊರಗನೆ ಪೂಜಿಸಿದವರ ಕಂಡು,
ನಾಚಿದೆ ನಾಚಿದೆನಯ್ಯಾ.
ಒಳಗೆ, ಒಂದು ಅನು(ನಿ ?)ಮಿಷಲಿಂಗವ ಕಂಡು,
ಎನ್ನ ಮನೋಪುಷ್ಪದಲ್ಲಿ ಪೂಜಿಸಿದಡೆ
ನಾಚಿಕೆ ಮಾದು ನಿಸ್ಸಂದೇಹಿಯಾದೆನು – ಗುಹೇಶ್ವರಾ. ॥೧೦೭॥

೪೧೮

ಅರಗಿನ ದೇಗುಲದಲ್ಲಿ ಒಂದು ಉರಿಯ ಲಿಂಗವ ಕಂಡೆ.
ಮತ್ತೆ ದೇವರ ಪೂಜಿಸುವರಾರೂ ಇಲ್ಲ.
ಉತ್ತರಾಪಥದ ದಶನಾಡಿಗಳಿಗೆ,
ಸುತ್ತಿಮುತ್ತಿದ ಮಾಯೆ ಎತ್ತಲಿಕೆ ಹೋಯಿತ್ತು ?
ಮರನೊಳಗಣ ಕಿಚ್ಚು ಮರನ ಸುಟ್ಟುದ ಕಂಡೆ !
ಗುಹೇಶ್ವರನೆಂಬ ಲಿಂಗ ಅಲ್ಲಿಯೆ ನಿಂದಿತ್ತು. ॥೧೦೮॥

೪೧೯

ಮನ ಮುಟ್ಟದ ಮಜ್ಜನ ತನು ತಾಗದ ದೇಹಾರ,
ಭಾವ ತಾಗದ ಪೂಜೆ, ಎದೆ ತಾಗದ ನೋಟ
ವಾಯು ತಾಗದ [ಲಿಂಗದ] ಠಾವ ತೋರಾ ಗುಹೇಶ್ವರಾ. ॥೧೦೯॥

೪೨೦

ಒಂದೆ ಹೂ, ಒಂದೆ ಅಗ್ಘವಣಿ, ಒಂದೆ ಓಗರ,
ಒಂದೆ ಪ್ರಸಾದ, ಒಂದೆ ಮನ, ಒಂದೆ ಲಿಂಗ.
ನಂದಾದೀವಿಗೆ, ಕುಂದದ ಬೆಳಗು; ಸ್ವತಂತ್ರ ಪೂಜೆ – ಒಂದೇ.
ಅನಾಹತವೆರಡಾಗಿ ಬರುಮುಖರಾಗಿ ಕೆಟ್ಟುಹೋದರು ಗುಹೇಶ್ವರಾ. ॥೧೧೦॥

೪೨೧

ಮನವೆ ಲಿಂಗವಾದ ಬಳಿಕ ಇನ್ನಾರ ನೆನೆವುದಯ್ಯಾ ?
ಭಾವವೆ ಐಕ್ಯವಾದ ಬಳಿಕ ಬಯಸುವುದಿನ್ನಾರನು ?
ಭ್ರಮೆಯಳಿದು ನಿಜವು ಸಾಧ್ಯವಾದ ಬಳಿಕ
ಅರಿವುದಿನ್ನಾರನು ಗುಹೇಶ್ವರಾ ? ॥೧೧೧॥

೪೨೨

ಗಗನದ ಮೇಲೊಂದು ಸರೋವರ;
ಆ ಜಲದಲ್ಲಿ ಮುಖವ ತೊಳೆದು ಹೂವ ಕೊಯ್ವವರೆಲ್ಲರೂ;
ದೇವರಿಗೆ ಮುಖಮಜ್ಜನವನೆರೆದು, ಪೂಜಿಸಿ ಹೊಡವಂಟಡೆ
ಒಮ್ಮೆ ನಾಯಕನರಕ ತಪ್ಪದಲ್ಲಾ!
ದೇವಲೋಕದ ಪ್ರಮಥರ ಲಜ್ಜೆಯನೇನ ಹೇಳುವೆ ಗುಹೇಶ್ವರಾ. ॥೧೧೨॥

೪೨೩

ಮಲಿನ ದೇಹಕ್ಕೆ ಮಜ್ಜನವಲ್ಲದೆ, ನಿರ್ಮಲದೇಹಕ್ಕೆ ಮಜ್ಜನವೇಕೊ ?
ಉಂಟೆ ವಿಷಯ ಲಿಂಗ ನಿಷ್ಪತ್ತಿಯಾದ ಶರಣಂಗೆ ?
ಆಗಮ್ಯ ಅಗೋಚರ ಅಪ್ರಮಾಣ ಗುಹೇಶ್ವರಾ–ನಿಮ್ಮ ಶರಣ. ॥೧೧೩॥

೪೨೪

ಮಜ್ಜನಕ್ಕೆರೆವಡೆ; ನೀನು ಶುದ್ಧ ನಿರ್ಮಲದೇಹಿ.
ಪೂಜೆಯ ಮಾಡುವಡೆ; ನಿನಗೆ ಗಗನಕಮಲಕುಸುಮದ ಅಖಂಡಿತಪೂಜೆ.
ಧೂಪದೀಪಾರತಿಗಳ ಬೆಳಗುವಡೆ; ನೀನು ಸ್ವಯಂ ಜ್ಯೋತಿಪ್ರಕಾಶನು.
ಅರ್ಪಿತವ ಮಾಡುವಡೆ; ನೀನು ನಿತ್ಯತೃಪ್ತನು.
ಅಷ್ಟವಿಧಾರ್ಚನೆಗಳ ಮಾಡುವಡೆ; ನೀನು ಮುಟ್ಟಬಾರದ ಘನವೇದ್ಯನು.
ನಿತ್ಯನೇಮಗಳ ಮಾಡುವಡೆ;
ನಿನಗೆ ಅನಂತನಾಮಂಗಳಾದವು ಗುಹೇಶ್ವರಾ. ॥೧೧೪॥

೪೨೫

ಒಲುಮೆಯ ಕೂಟಕ್ಕೆ ಹಾಸಿನ ಹಂಗೇಕೆ ?
ಬೇಟದ ಮರುಳಗೆ ಲಜ್ಜೆ ಮುನ್ನುಂಟೆ ?
ನಿಮ್ಮನರಿದ ಶರಣಂಗೆ ಪೂಜೆಯ ಹಂಬಲ, ದಂದುಗವೇಕೆ ?
ಮಿಸುನಿಯ ಚಿನ್ನಕ್ಕೆ ಒರೆಗಲ್ಲ ಹಂಗೇಕೆ ?
ಗುಹೇಶ್ವರಲಿಂಗಕ್ಕೆ ಕುರುಹು ಮುನ್ನುಂಟೆ ? ॥೧೧೫॥

೪೨೬

ಮುಂಡಧಾರಿಯ ತಲೆ ಮುಂದೆ ಬರ್ಪುದ ಕಂಡೆ.
ಜಟಾಧಾರಿಯ ತಲೆ ನಡೆದು ಹೋಯಿತ್ತ ಕಂಡೆ.
ಖಂಡಕಪಾಲಿಯ ಖಂಡವ ಕೊಯಿತ್ತ ಕಂಡೆ.
ಬಾಲಬ್ರಹ್ಮಚಾರಿಯ ಬಾರನೆತ್ತಿತ್ತ ಕಂಡೆ.
ಭಕ್ತರೆಲ್ಲರೂ ಸತ್ತು ನೆಲಕ್ಕಿಕ್ಕಿತ್ತ ಕಂಡೆ.
ಗುಹೇಶ್ವರಾ ನೀ ಸತ್ತು ಲಿಂಗವಾಯಿತ್ತ ಕಂಡೆ. ॥೧೧೬॥

೪೨೭

ಎನ್ನಲ್ಲಿ ನಾನು ನಿಜವಾಗಿ ನಿಮ್ಮನರಿದೆಹೆನೆಂದಡೆ
ಅದು ನಿಮ್ಮ ಮತಕ್ಕೆ ಬಪ್ಪುದೆ?

ಎನ್ನ ನಾನು ಮರೆದು, ನಿಮ್ಮನರಿದಡೆ,
ಅದು ನಿಮ್ಮ ರೂಪೆಂಬೆ.
ಎನ್ನ ನಿನ್ನೊಳು ಮರೆದಡೆ, ಕನ್ನಡಿಯೊಳಗಣ ಪ್ರತಿಬಿಂಬದಂತೆ
ಭಿನ್ನವಿಲ್ಲದೆ ಇದ್ದೆನು ಕಾಣಾ ಗುಹೇಶ್ವರಾ. ॥೧೧೭॥

೪೨೮

ಭಕ್ತಂಗೆ ಉತ್ಪತ್ಯ(ತ್ತಿ?) ವಿಲ್ಲಾಗಿ, ಸ್ಥಿತಿಯಿಲ್ಲ.
ಸ್ಥಿತಿಯಿಲ್ಲಾಗಿ ಲಯವಿಲ್ಲ.–ಮುನ್ನ ಎಲ್ಲಿಂದ ಬಂದನಲ್ಲಿಗೆ ಹೋಗಿ,
ನಿತ್ಯನಾಗಿರ್ಪ ಗುಹೇಶ್ವರಾ ನಿಮ್ಮ ಶರಣ. ॥೧೧೮॥

೪೨೯

ತುಂಬಿ ಬಂದಡೆ ಪರಿಮಳ ಓಡಿತ್ತ ಕಂಡೆ !
ಇದೇನು ಸೋಜಿಗ ಹೇಳಾ ?
ಮನ ಬಂದಡೆ ಬುದ್ಧಿ ಓಡಿತ್ತ ಕಂಡೆ,
ದೇವ ಬಂದಡೆ ದೇಗುಲ ಓಡಿತ್ತ ಕಂಡೆ–ಗುಹೇಶ್ವರಾ. ॥೧೧೯॥

೪೩೦

ರಂಗ ಒಂದೇ ಕಂಭ ಒಂದೇ ದೇವರೊಂದೇ ದೇಗುಲ ಒಂದೇ.
ಗುಹೇಶ್ವರಾ ನಿಮ್ಮ ಮನ್ನಣೆಯ ಶರಣರ ದೇವರೆಂದೆಂಬೆ. ॥೧೨೦॥

೪೩೧

ಊರ ಹೊರಗೊಂದು ದೇಗುಲ.
ದೇಗುಲದೊಳಗೊಬ್ಬ ಗೊರತಿ ನೋಡಯ್ಯಾ.
ಗೊರತಿಯ ಕೈಯಲ್ಲಿ ಸೂಜಿ, ಸೂಜಿಯ ಮೊನೆಯಲ್ಲಿ ಹದಿನಾಲ್ಕು ಲೋಕ !
ಗೊರತಿಯ, ಸೂಜಿಯ, ಹದಿನಾಲ್ಕು ಲೋಕವ;
ಒಂದಿರುಹೆ ನುಂಗಿತ್ತ ಕಂಡೆ !– ಗುಹೇಶ್ವರಾ. ॥೧೨೧॥

೪೩೨

ಮನಕ್ಕೆ ಮನೋಹರವಾದಡೆ ಮನಕ್ಕೆ ಭಂಗ ನೋಡಾ.
ತನುವಿನಲ್ಲಿ ಸುಖವ ಧರಿಸಿಕೊಂಡಡೆ, ಆ ತನುವಿಂಗೆ ಕೊರತೆ ನೋಡಾ.

ಅರಿವನರಿದು ಸುಖವಾಯಿತ್ತೆಂದಡೆ,
[ಆ] ಅರಿವಿಂಗೆ ಭಂಗ ನೋಡಾ–ಗುಹೇಶ್ವರಾ. ॥೧೨೨॥

೪೩೩

'ನ' ಎಂಬುದೆ ನಂದಿಯಾಗಿ, 'ಮ' ಎಂಬುದೆ ಮಹತ್ತಾಗಿ,
'ಶಿ' ಎಂಬುದೆ ರುದ್ರನಾಗಿ, 'ವಾ' ಎಂಬುದೆ ಹಂಸೆಯಾಗಿ,
'ಯ' ಎಂಬುದೆ ಅರಿವಾಗಿ, 'ಓಂ' ಕಾರವೆ ಗುರುವಾಗಿ,
ಸಂಬಂಧವೆ ಅಸಂಬಂಧವಾಗಿ, ಅಸಂಬಂಧವೆ ಸಂಬಂಧವಾಗಿ,
ಎರಡೂ ಒಂದಾಗಿ ಗುಹೇಶ್ವರಲಿಂಗಸಂಬಂಧಿ ! ॥೧೨೩॥

೪೩೪

ಜಗದಗಲದ ಮಂಟಪಕ್ಕೆ, ಮುಗಿಲಗಲದ ಮೇಲುಕಟ್ಟಿನಲ್ಲಿ
ಚಿತ್ರ [ವಿಚಿತ್ರ]ವ ನೋಡುತ್ತ ನೋಡುತ್ತ;
ಧ್ಯಾನವಿಶ್ರಾಮದಲ್ಲಿ ದಿಟದಿಟವೆಂಬುದೊಂದು ದರುಶನವ ನೋಡುತ್ತ ನೋಡುತ್ತ,
ಗಗನಗಂಭೀರದಲ್ಲಿ ಉದಯವಾಯಿತ್ತ ಕಂಡೆ !
ಗುಹೇಶ್ವರನೆಂಬ ಲಿಂಗವು ತಾನೆಯಾಗಿ ! ॥೧೨೪॥

೪೩೫

ಹಿಂದಣ ಅನಂತವನೂ, ಮುಂದಣ ಅನಂತವನೂ
ಒಂದು ದಿನ ಒಳಕೊಂಡಿತ್ತು, ನೋಡಾ !
ಒಂದು ದಿನವನೊಳಕೊಂಡು ಮಾತಾಡುವ
ಮಹಂತನ ಕಂಡು ಬಲ್ಲವರಾರಯ್ಯ ?
ಆದ್ಯರು ವೇದ್ಯರು ಅನಂತ ಹಿರಿಯರು,
ಲಿಂಗದಂತುವನರಿಯದೆ ಅಂತೆ ಹೋದರು ಕಾಣಾ ಗುಹೇಶ್ವರಾ ! ॥೧೨೫॥

೪೩೬

ಹುಟ್ಟುವರೆಲ್ಲರ ಹುಟ್ಟಬೇಡೆಂದೆನೆ ?
ಹೊಂದುವರೆಲ್ಲರ ಹೊಂದಬೇಡೆಂದೆನೆ ?
ಪ್ರಳಯದಲ್ಲಿ ಅಳಿವರ ಅಳಿಯಬೇಡೆಂದೆನೆ ?
ಗುಹೇಶ್ವರಾ ನಿಮ್ಮನರಿದು ನೆರೆದ ಬಳಿಕ.
ಧರೆಯ ಮೇಲುಳ್ಳವರನಿರಬೇಡವೆಂದೆನೆ ? ॥೧೨೬॥

೪೩೭

ಆದಿಯಾಧಾರವುಳ್ಳನ್ನಕ್ಕರ ಉಪಚಾರ,
ಎರಡೂ ಒಂದಾದಡೆ ಶಿವಾಚಾರ.
ಆ ಶಿವಾಚಾರ ಸಯವಾದಡೆ ಬ್ರಹ್ಮಾಚಾರ,
ಗುಹೇಶ್ವರನನರಿದಡೆ ಅನಾಚಾರ ! ॥೧೨೭॥

೪೩೮

ಕಿಚ್ಚಿನೊಳಗೆ(ನೊಡನೆ?) ಹೋರಿದ ಹುಳ್ಳಿಯಂತಾದೆನಯ್ಯಾ.
ಬೆಂದ ನುಲಿಯ ಸಂದಿಕ್ಕಿ ಮತ್ತೊಂದ ಮಾಡಬಾರದಯ್ಯಾ.
ಗುಹೇಶ್ವರಾ–ನಿಮ್ಮ ನಿಲವಿನ ಪರಿ ಇಂತುಟಯ್ಯಾ. ॥೧೨೮॥

೪೩೯

ಸತ್ತ ಕೋಳಿ ಎದ್ದು ಕೂಗಿತ್ತ ಕಂಡೆ.
ಮೊತ್ತದ ಮಾಮರನುಲಿಯಿತ್ತ ಕಂಡೆ.
ಕತ್ತಲೆ ಬೆಳಗಾಯಿತ್ತ ಕಂಡೆ.
ಹೊತ್ತಾರೆ ಎದ್ದು ಹೊಲಬುದಪ್ಪುದ ಕಂಡೆ.
ಇದೇನು ಹತ್ತಿತ್ತೆಂದರಿಯೆ ಗುಹೇಶ್ವರಾ. ॥೧೨೯॥

೪೪೦

ಪರಮ(ಪರ?)ತತ್ವದಲ್ಲಿ ತದ್ಗತವಾದ ಬಳಿಕ
ಬೇರೆ ಮತ್ತೆ ಅರಿದೆಹೆನೆಂಬ ಭ್ರಾಂತೇಕೆ ?
ಅರಿವು ಸಯವಾಗಿ ಮರಹು ನಷ್ಟವಾದ ಬಳಿಕ
ತಾನಾರೆಂಬ ವಿಚಾರವೇಕೆ ?
ಗುಹೇಶ್ವರನ ಬೆರಸಿ ಭೇದಗೆಟ್ಟ ಬಳಿಕ
ಮತ್ತೆ ಸಂಗವ ಮಾಡಿಹೆನೆಂಬ ತವಕವೇಕಯ್ಯಾ ? ॥೧೩೦॥

೪೪೧

ಇಂದು ಸಾವ ಹೆಂಡತಿಗೆ, ನಾಳೆ ಸಾವ ಗಂಡನವ್ವಾ !
ಗಳಿಗೆಗಳಿಗೆಗೆ ಮಗು ಹುಟ್ಟಿ ಕೈ ಬಾಯ್ಗೆ ಬಂದಿತ್ತವ್ವಾ !
ಅರಿವು ಕುರುಹನು ಮರವೆ ನುಂಗಿತ್ತು;
ಗುಹೇಶ್ವರನುಳಿದನವ್ವಾ ! ॥೧೩೧॥

೪೪೨

ಮರುಳುಂಡ ಮನುಷ್ಯನ ಇರವಿನ ಪರಿಯಂತೆ,
ವಿವರವನರಿಯಬಾರದು ನೋಡಾ,– ಶಿವಜ್ಞಾನ.
ಅದನರಿದೆಹೆನರಿದೆಹೆನೆಂದು ನೆನೆಯ ಹೋದರೆ, ಅದು ಮುಂದುದೋರದು.
ಮರೆದೆಹೆನೆಂದು ಭಾವಿಸ ಹೋದಡೆ ತೆರಹುಗೊಡದು !
ಗುಹೇಶ್ವರಾ, ನಿಮ್ಮ ನೆರೆ ಅರಿದ ಶರಣರು;
ನಿಸ್ಸೀಮಸುಖಿಗಳು ನೋಡಾ. ॥೧೩೨॥

೪೪೩

ಮಣ್ಣಿಲ್ಲದ ಹಾಳ ಮೇಲೆ, ಕಣ್ಣಿಲ್ಲದಾತ ಮಣಿಯ ಕಂಡ,
ಕೈಯಿಲ್ಲದಾತ ಪವಣಿಸಿದ, ಕೊರಳಿಲ್ಲದಾತ ಕಟ್ಟಿಕೊಂಡ !
ಅಂಗವಿಲ್ಲದ ಸಿಂಗಾರಕ್ಕೆ ಭಂಗವುಂಟೆ ಗುಹೇಶ್ವರಾ ? ॥೧೩೩॥

೪೪೪

ಕಾಮಿಸದೆ ನೆನೆದಡೆ, ಕಲ್ಪಿತವಿಲ್ಲದ ಪುರುಷ ಬಂದನೆನಗೆ ನೋಡಾ !
ಕಲ್ಪಿತವಿಲ್ಲದೆ ನೆನೆದಡೆ, ಭಾವಿಸಲಿಲ್ಲದ ಸುಖವು ದೊರಕಿತ್ತು ನೋಡಾ !
ಗುಹೇಶ್ವರನೆಂಬ ಲಿಂಗವನರಿದ ಬಳಿಕ, 'ನಾ' ಎಂಬುದಿಲ್ಲ ನೋಡಾ ! ॥೧೩೪॥

೪೪೫

ನೆಲ ಹುಟ್ಟದಂದಿನ ಧವಳಾರ,
ಧವಳಾರದೊಳಗೊಬ್ಬ ಸೂಳೆ ನೋಡಯ್ಯಾ.
ತಲೆಯಿಲ್ಲದಾತ ನಿಚ್ಚಕ್ಕೆ ಬಪ್ಪ,
ಕರುಳಿಲ್ಲದಾತ ಕುಂಟಣಿಯಾದ ನೋಡಯ್ಯಾ.
ಕೈಕಾಲಿಲ್ಲದೆ ಅಪ್ಪಲೊಡನೆ !–
ಇದ ಕಂಡು ಬೆರಗಾದೆ ಗುಹೇಶ್ವರಾ. ॥೧೩೫॥

೪೪೬

ಪರಮತತ್ವ (ಪರತತ್ವ?)ದೊಳಗಿರಬಲ್ಲಡೆ: ಉಣಲಾಗದು ಉಣದಿರಲಾಗದು.
ಎಲ್ಲರ ಸಂಗದಲ್ಲಿರಲಾಗದು, ಮತ್ತೆ ಒಬ್ಬನೆ ಇರಲಾಗದು.
ತಾಯಿ ಸತ್ತ ಆರುದಿಂಗಳಿಗೆ ತಾ ಹುಟ್ಟಿದ. ಮೂಲ ಗುಹೇಶ್ವರ. ॥೧೩೬॥

೪೪೭

ಸುಳಿಯ ಬಲ್ಲಡೆ ಸುಳುಹೆ ಲೇಸಯ್ಯಾ.
ಗಮನವಿಲ್ಲದೆ ಸುಳಿಯ ಬಲ್ಲಡೆ, ನಿರ್ಗಮನಿಯಾಗಿ ನಿಲ್ಲಬಲ್ಲಡೆ,
ಅದಕ್ಕದೆ ಪರಿಣಾಮ ಅದಕ್ಕದೆ ಸಂತೋಷ.
ಗುಹೇಶ್ವರಲಿಂಗದಲ್ಲಿ ಅವರ ಜಗದಾರಾಧ್ಯರೆಂಬೆ. ॥೧೩೭॥

೪೪೮

ತಾ ನಡೆವಡೆ ನಡೆಗೆಟ್ಟ ನಡೆಯ ನಡೆವುದಯ್ಯಾ.
ತಾ ನುಡಿವಡೆ ನುಡಿಗೆಟ್ಟ ನುಡಿಯ ನುಡಿವುದಯ್ಯಾ.
ರೂಹಿಲ್ಲದ ಸಂಗವ ಮಾಡಬೇಕು,
ಭವವಿಲ್ಲದ ಭಕ್ತಿಯ ಮಾಡಬೇಕು.
ತಾನಾವನೆಂದರಿಯದಂತಿಹುದು, ಗುಹೇಶ್ವರಾ. ॥೧೩೮॥

೪೪೯

ಕಾಲಿಲ್ಲದ ಗಮನ, ಕೈಯಿಲ್ಲದ ಸೋಂಕು, ಬಾಯಿಲ್ಲದ ರುಚಿ,
ಭಾವವೆ ಕರ್ಪರವಾಗಿ 'ಪರಮ ದೇಹಿ' ಎಂದು ಬೇಡುವ
ಪರಮನ ತೋರಯ್ಯಾ ಗುಹೇಶ್ವರಾ. ॥೧೩೯॥

೪೫೦

ಕಣ್ಣೆ ಕಟ್ಟಿಗೆಯಾಗಿ, ಕೈಯೆ ಕರ್ಪರವಾಗಿ ,
ಕಿವಿಯೆ ಸಕಲಪುರಾತನರ ಕಾರುಣ್ಯವೆನುತ,
ಮನದ ಭಿಕ್ಷವನುಂಡು, ತನು ಪರಿಣಾಮವನೆಯ್ದಿಹ
ಘನಮಹಿಮರ ತೋರಯ್ಯಾ ಗುಹೇಶ್ವರಾ. ॥೧೪೦॥

೪೫೧

ಕಂಗಳ ಕರುಳ ಕೊಯ್ದವರ, ಮನದ ತಿರುಳ ಹುರಿದವರ,
ಮಾತಿನ ಮೊದಲ ಬಲ್ಲವರ; ಎನಗೊಮ್ಮೆ ತೋರಾ ಗುಹೇಶ್ವರಾ. ॥೧೪೧॥

೪೫೨

ಆದಿಪುರ ವೇದಪುರ ಹಿಮಪುರ ಖಂಡಿತ ಅಖಂಡಿತ –
ಶಿವಶಿವಾ ಗಗನವ ಮನ ನುಂಗಿತ್ತು.

ಆದಿ ವೇದವ ನುಂಗಿ, ವೇದ ಸ್ವಯಂಭುವ ನುಂಗಿ,
ಕಾಲ ಕರ್ಮ ಹಿಂಗಿತ್ತು – ಗುಹೇಶ್ವರಾ ನಿಮ್ಮ ಶರಣಂಗೆ. ॥೧೪೨॥

೪೫೩

ಮನದೊಳಗೆ ಘನ ವೇದ್ಯವಾಗಿ, ಘನದೊಳಗೆ ಮನ ವೇದ್ಯವಾದ ಬಳಿಕ
ಪುಣ್ಯವಿಲ್ಲ ಪಾಪವಿಲ್ಲ, ಸುಖವಿಲ್ಲ ದುಃಖವಿಲ್ಲ,
ಕಾಲವಿಲ್ಲ ಕರ್ಮವಿಲ್ಲ, ಜನನವಿಲ್ಲ ಮರಣವಿಲ್ಲ.
ಗುಹೇಶ್ವರಾ ನಿಮ್ಮ ಶರಣನು ಘನಮಹಿಮ ನೋಡಯ್ಯಾ. ॥೧೪೩॥

೪೫೪

ಬೋನದೊಳಗೊಂದು ಆನೆ ಇದ್ದಿತ್ತು.
ಬೋನ ಬೆಂದಿತ್ತು ಆನೆ ಬದುಕಿತ್ತು – ಇದೇನು ಸೋಜಿಗವಯ್ಯಾ ?
ದೇವ ಸತ್ತ, ದೇವಿ ಕೆಟ್ಟಳು !
ಆನು ಬದುಕಿದೆನು ಗುಹೇಶ್ವರಾ. ॥೧೪೪॥

೪೫೫

ಪರುಷಕ್ಕೆ ಬೆಲೆಯಿಲ್ಲ, ಪ್ರಾಣಕ್ಕೆ ನಿರ್ಮಾಲ್ಯವಿಲ್ಲ.
ರುಚಿಗೆ ಎಂಜಲಿಲ್ಲ, ಸುಖಕ್ಕೆ ಆರೋಚಕವಿಲ್ಲ.
ಗುಹೇಶ್ವರಾ ನಿಮ್ಮ ಶರಣಂಗೆ ಭವವಿಲ್ಲ ಬಂಧನವಿಲ್ಲಯ್ಯಾ. ॥೧೪೫॥

೪೫೬

ಅಮೃತ ಸೇವನೆಯ ಮಾಡಿ ಆಪ್ಯಾಯನ ಘನವಾಯಿತ್ತು.
ಪರುಷವೇದಿಯ ಸಾಧಿಸ ಹೋದಡೆ ದಾರಿದ್ರ್ಯ ಘನವಾಯಿತ್ತು.
ಮರುಜೇ (ಜ?)ವಣಿಯ ಹಣ್ಣ ಮೆದ್ದು, ಮರಣವಾಯಿತ್ತ ಕಂಡೆ.
ಎಲ್ಲವನೂ ಸಾಧಿಸ ಹೋದಡೆ ಏನೂ ಇಲ್ಲದಂತಾಯಿತ್ತು.
ನಾನು ನಿಜವ ಸಾಧಿಸಿ ಬದುಕಿದೆನು ಗುಹೇಶ್ವರಾ. ॥೧೪೬॥

೪೫೭

ಒಂದು ಇಲ್ಲದ ಬಿಂದುವ, ತಂದೆಯಿಲ್ಲದ ಕಂದನ,
ಮಾತೆ ಇಲ್ಲದ ಜಾತನ, ಗಮನವಿಲ್ಲದ ಗಮ್ಯನ,
ಮೂಪರರಿಯದ ಮುಗ್ಧನ ಠಾವ ತೋರಿಸು ಗುಹೇಶ್ವರಾ. ॥೧೪೭॥

೪೫೮

ಪೂರ್ವಬೀಜವು ಬ್ರಹ್ಮಚರ್ಯವೆ ? ಅರಿವು ತಾ ಬ್ರಹ್ಮಚರ್ಯವೆ ?
ಜ್ಞಾನಾಜ್ಞಾನದುದಯ ತಾ ಬ್ರಹ್ಮಚರ್ಯವೆ ?
ಗುಹೇಶ್ವರಾ ನಿಮ್ಮ ಶರಣರ ಪರಿಣಾಮವೆ ಬ್ರಹ್ಮಚರ್ಯವು. ॥೧೪೮॥

೪೫೯

ನೆಳಲ ಹೂಳಿಹೆನೆಂದು ಬಳಲುತ್ತಿದೆ ಜಗವೆಲ್ಲಾ.
ನೆಳಲು ಸಾಯಬಲ್ಲುದೆ ಅಂಗಪ್ರಾಣಿಗಳಿಗೆ ?
ಸಮುದ್ರದಾಚೆಯ ತಡಿಯಲ್ಲಿ ಕಳ್ಳನ ಕಂಡು,
ಇಲ್ಲಿಂದ ಮುನಿದು ಬೈದಡೆ, ಅವ ಸಾಯಬಲ್ಲನೆ ?
ಭಾವದಲ್ಲಿ ಪೊಲಿದ ಹೊಲಿಗೆಯ ಭೇದವನರಿಯರು,
ಕಾಮಿಸಿದಡುಂಟೆ ನಮ್ಮ ಗುಹೇಶ್ವರಲಿಂಗವು ? ॥೧೪೯॥

೪೬೦

ಅಜ್ಞಾನವೆಂಬ ತೊಟ್ಟಿಲೊಳಗೆ, ಜ್ಞಾನವೆಂಬ ಶಿಶುವ ಮಲಗಿಸಿ,
ಸಕಲ ವೇದಶಾಸ್ತ್ರವೆಂಬ ನೇಣ ಕಟ್ಟಿ,
ಹಿಡಿದು ತೂಗಿ ಜೋಗುಳವಾಡುತ್ತಿದ್ದಾಳೆ ಭ್ರಾಂತಿಯೆಂಬ ತಾಯಿ !
ತೊಟ್ಟಿಲು ಮುರಿದು ನೇಣು ಹರಿದು, ಜೋಗುಳ ನಿಂದಲ್ಲದೆ,
ಗುಹೇಶ್ವರನೆಂಬ ಲಿಂಗವ ಕಾಣಬಾರದು. ॥೧೫೦॥

೪೬೧

ಮೋಟರ ಮದುವೆಗೆ ಭಂಡರು ಹರೆಯ ಹೊಯ್ದು,
ಮೂಕೊರತಿಯರು ಕಳಸವ ಹೊತ್ತರಲ್ಲಾ !
'ಉಘೇ ಚಾಂಗು ಭಲಾ' ಎಂದು ನಿಬ್ಬಣ ನೆರೆದು,
ಹೂದಂಬುಲಕ್ಕೆ ಮುನಿವರದೇಕಯ್ಯಾ ?
ತ್ರಿಜಗವೆಲ್ಲಾ ನಿಬ್ಬಣವಾಯಿತ್ತು,
ಗುಹೇಶ್ವರನನರಿಯದ ಹಗರಣವೊ ! ॥೧೫೧॥

೪೬೨

ಜ್ಯೋತಿ ಕಂಡಾ, ಇರಲು ಕತ್ತಲೆ ಕಂಡಾ !
ನಿಧಾನ ಕಂಡಾ, ಇರಲು ಬಡತನ ಕಂಡಾ !

ಪ್ರಸಾದ ಕಂಡಾ, ಕೊಂಡಡೆ ಪ್ರಳಯ ಕಂಡಾ !
ಗುಹೇಶ್ವರ ಕಂಡಾ, ಇದು ಭ್ರಾಂತು ಕಂಡಾ ! ॥೧೫೨॥

೪೬೩

ಜಲದೊಳಗೆ ಹುಟ್ಟಿ ನೆಲದೊಳಗೆ ಹುದುಗಿರ್ದುದ,
ಕೆಲಬಲದೊಳಗಿರ್ದವರೆಲ್ಲಾ ಬಲ್ಲರೆ ?
ಗಾಳಿಯೊಳಗಿಪ್ಪ ಜ್ಯೋತಿ ಕೆಡದೆ ಇದ್ದುದ ಕಂಡು –ನಾನು ಬೆರಗಾದೆ !
ಬಾಲಕ್ರೀಡೆಯೊಳಗಾಡುತ್ತಿಪ್ಪ ನಾರಿಯ ಮಕ್ಕಳೈವರು,
ಆರೂ ಕಾಣದ ಬಾವಿಯೊಳಗೆ ಬಿದ್ದಿರಲು,
ಬೇರೆ ಮತ್ತೆ ಜ್ಞಾನವೆಲ್ಲಿಯದೊ ?
ಗುಹೇಶ್ವರಾ, ನಿಮ್ಮನರಿಯದ, ಬರಿಯರಿವಿನ ಹಿರಿಯರ ಕಂಡಡೆ,
ನಾನು ನಾಚುವೆನಯ್ಯಾ. ॥೧೫೩॥

೪೬೪

ಕುಲಮದ ಛಲಮದ ವಿದ್ಯಾಮದದವರ ತೋರದಿರಾ.
ಅವರ ಅರೂಢಪದವಿಯನೆನಗೆ ತೋರದಿರಾ.
ಅವರ ಗರುವ ಗಂಭೀರವನೆನಗೆ ತೋರದಿರಾ.
ಶಮೆದಮೆಯುಳಿದು ದಶಮುಖ ನಿಂದು
ಲಿಂಗದಲ್ಲಿ ಲೀಯವಾದವರನಲ್ಲದೆ, ಎನಗೆ ತೋರದಿರಾ ಗುಹೇಶ್ವರಾ. ॥೧೫೪॥

೪೬೫

ವೇದವೆಂಬುದು ಓದಿನ ಮಾತು; ಶಾಸ್ತ್ರವೆಂಬುದು ಸಂತೆಯ ಸುದ್ದಿ.
ಪುರಾಣವೆಂಬುದು ಪುಂಡರ ಗೋಷ್ಠಿ, ತರ್ಕವೆಂಬುದು ತಗರ ಹೋರಟೆ.
ಭಕ್ತಿ ಎಂಬುದು ತೋರಿ ಉಂಬ ಲಾಭ.
ಗುಹೇಶ್ವರನೆಂಬುದು ಮೀರಿದ ಘನವು ! ॥೧೫೫॥

೪೬೬

ಆಸೆಯೆಂಬ ಶೂಲದ ಮೇಲೆ, ವೇಷವೆಂಬ ಹೆಣನ ಕುಳ್ಳಿರಿಸಿ:
ಧರೆಯ ಮೇಲುಳ್ಳ ಹಿರಿಯರು ಹೀಂಗೆ ಸವೆದರು ನೋಡಾ !
ಆಸೆಯ ಮುಂದಿಟ್ಟುಕೊಂಡು ಸುಳಿವ ಹಿರಿಯರ ಕಂಡು.
ಹೇಸಿಕೆಯಾಗಿತ್ತು ಗುಹೇಶ್ವರಾ. ॥೧೫೬॥

೪೬೭

ಧರೆಯ ಮೇಲುಳ್ಳ ಅರುಹಿರಿಯರೆಲ್ಲರೂ
ಮರುಳುಗೊಂಡಾಡುತ್ತಿದ್ದಾರೆ ನೋಡಾ.
ಮಂಜಿನ ಮಡಕೆಯೊಳಗೆ ರಂಜನೆಯ ಭಂಡವ ತುಂಬಿ
ಅಂಜದೆ ಪಾಕವ ಮಾಡಿಕೊಂಡು ಉಂಡು,
ಭಂಡವ ಮಾರುತ್ತಿರ್ಪರು ನೋಡಾ.
ಸಂಜೀವನಿಯ ಬೇರೆ ಕಾಣದೆ ಮರಣಕ್ಕೊಳಗಾದರು
ಗುಹೇಶ್ವರನನರಿಯದ ಭವಭಾರಕರೆಲ್ಲರು. ||೧೫೭||

೪೬೮

ಜಗದ ಕರ್ತನ ಕೈಯಲ್ಲಿ ಹಿಡಿದುಕೊಂಡು
ಮನೆಮನೆ ತಪ್ಪದೆ ತಿರುಗುವ ತುಡುಗುಣಿಯಂತೆ
ಕಾಡಲಾಗದು ಭಕ್ತನ, ಬೇಡಲಾಗದು ಭವಿಯ.
ಕಾಡಿ ಬೇಡಿ ನೀವು ಒಲಿಸಿಕೊಂಡಡೆ,
ಬೇಂಟೆಯ ಶ್ವಾನ ಮೊಲಕ್ಕೆ ಬಾಯಿದೆರೆದಂತೆ ಗುಹೇಶ್ವರಾ. ||೧೫೮||

೪೬೯

ಬಾಯಿ ಭಗವಾಗಿ ಕೈಯಿ ಇಂದ್ರಿಯವಾಗಿ
ಹಾಕುವ ತುತ್ತುಗಳೆಲ್ಲಾ ಬಿಂದು ಕಾಣಿರೊ !
ಪ್ರಥಮವಿಷಯವಿಂತಿರಲಿಕೆ, ಗುಹೇಶ್ವರ ಏಕೋ ಅದ್ವೈತ ! ||೧೫೯||

೪೭೦

ಜಾನು ಜಂಗೆಯಲ್ಲಿ ಹುಟ್ಟಿ ಜಂಗಮವೆನಿಸಿಕೊಳಬಹುದೆ ?
ಆ ಠಾವು ಹಿಂಗಿದಡೆ ಭಂಗಿತನು ಕಂಡಾ.
ಅಂತರಂಗದಲೊದಗೂದನರಿಯರು
ಗುಹೇಶ್ವರನೆಂಬುದು ಮೀರಿದ ಘನವು ! ||೧೬೦||

೪೭೧

ಜಂಗಮಸ್ಥಲಕ್ಕೆ ಲಕ್ಷಣವಾವುದೆಂದಡೆ ಹೇಳಿಹೆ ಕೇಳಿರಣ್ಣಾ :
ಮೂರರ ಹೊಲಿಗೆಯ ಬಿಚ್ಚಿ ಆರ ಮಾಡಬೇಕು.
ಆರರ ತಿರುಳ ತೆಗೆದು ಒಂದರೊಳಗೆ ನಿಲಿಸಬೇಕು.

ಐದರ ಮುಸುಕನುಗಿದು, ಐದರ ಕಳೆಯ ಕೆಡಿಸಿ
ಐದರ ನಿಲವನಡಗಿಸಿ, ಮೂರರ ಮುದ್ರೆಯನೊಡೆದು
ನಾಲ್ಕರೊಳಗೆ ನಿಲ್ಲದೆ, ಮೂರು ಮುಖವು ಒಂದು ಭಾಗವಾಗಿ ಇರಬೇಕು !
ಈ ಭೇದವನರಿಯದೆ ಸುಳಿವರ ಕಂಡು
ಬೆರಗಾದೆ ಕಾಣಾ ಗುಹೇಶ್ವರಾ. ॥೧೬೧॥

೪೭೨

ಹಗಲ ಇರುಳ ಮಾಡಿ, ಇರುಳ ಹಗಲ ಮಾಡಿ,
ಆಚಾರವ ಅನಾಚಾರವ ಮಾಡಿ, ಅನಾಚಾರವ ಆಚಾರವ ಮಾಡಿ,
ಭಕ್ತನ ಭವಿಯ ಮಾಡಿ, ಭವಿಯ ಭಕ್ತನ ಮಾಡಿ
ನುಡಿವವರ ಮಾತ ಕೇಳಲಾಗದು ಗುಹೇಶ್ವರಾ. ॥೧೬೨॥

೪೭೩

ಇಷ್ಟಲಿಂಗವ ತೋರಿ ಮೃಷ್ಟಾನ್ನವ ಹಾರುವವರಿಗೆ
ಇಷ್ಟಾರ್ಥಸಿದ್ಧಿ ಇನ್ನೆಲ್ಲಿಯದೊ ?
ಅದೆಲ್ಲಿಯದೊ ಲಿಂಗ ಅದೆಲ್ಲಿಯದೊ ಜಂಗಮ ?
ಅದೆಲ್ಲಿಯದೊ ಪಾದೋದಕ ಪ್ರಸಾದ ?
ಅಲ್ಲದಾಟವನಾಡಿ ಎಲ್ಲರೂ ಮುಂದುಗೆಟ್ಟರು,–
ಗುಹೇಶ್ವರಾ ನಿಮ್ಮಾಣೆ. ॥೧೬೩॥

೪೭೪

ಕಂಕುಳೆಂಬುದು ಕವುಚಿನ ತವರುಮನೆ.
ಕರಸ್ಥಲವೆಂಬುದು [ಕೈ] ಕೆಟ್ಟ ಹುಣ್ಣು.
ಅಮಳೋಕ್ಯವೆಂಬುದು ಬಾಯ ಭಗಂದರ (ಬಗದಳ ?).
ಅಂಗಸೋಂಕೆಂಬುದು ಪಾಪದ ತವರುಮನೆ.
ಉತ್ತಮಾಂಗವೆಂಬುದು ನೆತ್ತಿಯ ಮೃತ್ಯು.
ಕಂಠವೆಂಬುದು ಗಂಟಲ ಗಾಣ.
ಮತ್ತೆ, ಗುಹೇಶ್ವರನ ಮಾತು ನಿಮಗೇಕೆಲವೊ ? ॥೧೬೪॥

೪೭೫

ಅರಿವು ಅರಿವು ಎನುತಿಪ್ಪಿರಿ. ಅರಿವು ಸಾಮಾನ್ಯವೆ ?
ಹಿಂದಣ ಹೆಜ್ಜೆಯ ನೋಡಿ ಕಂಡಲ್ಲದೆ

ನಿಂದ ಹೆಜ್ಜೆಯನರಿಯಬಾರದು.
ಮುಂದಣ ಹೆಜ್ಜೆಯಳಿದಲ್ಲದೆ, ಒಂದು ಪಾದ ನೆಲೆಗೊಳ್ಳದು.
ನೆಲನ ಬಿಟ್ಟು ಆಕಾಶದಲ್ಲಿ ನಿಂದು ಮುಗಿಲೊಳಗೆ ಮಿಂಚಿದಲ್ಲದೆ
ತಾನಾಗಬಾರದು. – ಗುಹೇಶ್ವರನೆಂಬುದು ಬರಿದೆ ಬಹುದೆ ಹೇಳಿರೆ ? ॥೧೬೫॥

೪೭೬

ಹರಿದು ಹತ್ತಿ ಮುಟ್ಟಿ ಹಿಡಿದೆಹೆವೆಂದು
ಜಾರಿ ಉರುಳಿ ಬಿದ್ದರು ಅನಂತರು.
ಹಿಡಿದವರೆಲ್ಲ ಹೆಣನುಂಡು ಹೋದರು.
ನಾ ಹಿಡಿದ ಬಂಡಿ(ಬಂದಿ?)
ಒಡಬಂಡಿ(ಒಡಬಂದಿ?)ಯಾಯಿತ್ತು ಗುಹೇಶ್ವರಾ. ॥೧೬೬॥

೪೭೭

ಆದಿಯಾಧಾರ ತನುಗುಣವುಳ್ಳನ್ನಕ್ಕರ ಸಮತೆಯೆಂಬುದೇನೊ ?
ಕಾಲಕಲ್ಪಿತ ಉಪಾಧಿಯುಳ್ಳನ್ನಕ್ಕರ ಶೀಲವೆಂಬುದು ಭಂಗ.
ಕಾಮವೆಂಬುದರ ಬೆಂಬಳಿಯ ಕೂಸಿನ ಹುಸಿಯೆ ತಾನೆಂದು
ತಿಳಿಯದನ್ನಕ್ಕರ,
ಗುಹೇಶ್ವರಾ ನಿಮ್ಮ ನಾಮಕ್ಕೆ ನಾಚದವರನೇನೆಂಬೆನು ? ॥೧೬೭॥

೪೭೮

ಮದ್ಯ ಮಾಂಸಾದಿಗಳ ಮುಟ್ಟೆವೆಂದೆಂಬಿರಿ – ನೀವು ಕೇಳಿರೆ.
ಮದ್ಯವಲ್ಲದೇ(ವೇ?)ನು ಅಷ್ಟಮದಂಗಳು ?
ಮಾಂಸವಲ್ಲದೇ(ವೇ?)ನು ಸಂಸಾರಸಂಗ ? ಈ
ಉಭಯವನತಿಗಳದಾತನೆ, ಗುಹೇಶ್ವರಲಿಂಗದಲ್ಲಿ ಲಿಂಗೈಕ್ಯನು. ॥೧೬೮॥

೪೭೯

ದಾರಿಗೊಂಡು ಹೋಹವರೆಲ್ಲರೂ ನೀವು ಕೇಳಿರೆ.
ಮೂರು ಬಟ್ಟೆ ಕೂಡಿದ ಠಾವಿನಲ್ಲಿ ಒಬ್ಬ ಹೆಮ್ಮಾರಿ ಐದಾಳೆ.
ಆ ಮಾರಿಯ ಬಾಯೊಳಗೆ ಮೂರು ಘಟ್ಟವಿಪ್ಪುವು.
ನಂಜಿನ ಸೊನೆ ಸುರಿವುತ್ತಿಪ್ಪುದು.
ಕಾಡ ಕೋಣನ ಮುಖದಲ್ಲಿ ಕತ್ತಲೆ ಕಾಣಲೀಸದು.

ಐದು ಬಾಯ ಹುಲಿ ಆಗುಳಿಸುತ್ತಿಪ್ಪುದು.
ಇವೆಲ್ಲವ ಗೆದ್ದಲ್ಲದೆ ಗುಹೇಶ್ವರನ ಕಾಣಬಾರದು. ॥೧೬೯॥

೪೪೦

ಜಂಗಮ ಘನವೆಂಬೆನೆ? ಬೇಡಿ ಕಿರಿದಾಯಿತ್ತು.
ಲಿಂಗ ಘನವೆಂಬೆನೆ? ಕಲುಕುಟಿಗನ ಕೈಯಲ್ಲಿ
ಮೂಡಿಸಿಕೊಂಡು ಕಿರಿದಾಯಿತ್ತು.
ಭಕ್ತ ಘನವೆಂಬೆನೆ? ತನು–ಮನ–ಧನದಲ್ಲಿ ವಂಚಕನಾಗಿ ಕಿರಿದಾದ.
–ಇಂತೀ ತ್ರಿವಿಧದಲ್ಲಿ ಪರಿಣಾಮವಿಲ್ಲ ಪರಮಾರ್ಥವಿಲ್ಲ.
ಘನವ ಬಲ್ಲವರಾರೊ ಗುಹೇಶ್ವರಾ ? ॥೧೭೦॥

೪೪೧

ಭಕ್ತರೆಲ್ಲರೂ ಲಂದಣಿಗರಾಗಿ ಹೋಯಿತ್ತು.
ಜಂಗಮಗಳೆಲ್ಲರೂ (ಜಂಗಮವೆಲ್ಲ?)
ಉಪಜೀವಿಗಳಾಗಿ, ಹೋದರು (ಹೋಯಿತ್ತು?).
ಇದೇನೊ? ಇದೆಂತೊ? ಅರಿಯಲೆ ಬಾರದು.
ಕಾಯಗುಣ ನಾಸ್ತಿಯಾದಾತ ಭಕ್ತ,
ಪ್ರಾಣಗುಣ ನಾಸ್ತಿಯಾದಾತ ಜಂಗಮ,
ಉಳಿದವೆಲ್ಲವ ಸಟೆಯೆಂಬೆ ಗುಹೇಶ್ವರಾ. ॥೧೭೧॥

೪೪೨

ಜ್ಞಾನದ ಉಬ್ಬು ಕೊಬ್ಬಿನಲ್ಲಿ ನುಡಿವುತ್ತಿಪ್ಪರೆಲ್ಲರ (ಉಲಿವುತ್ತಿಪ್ಪರೆಲ್ಲರ ?);
ನಾಮ ನಾಸ್ತಿಯಾಗದು, ತನುಗುಣ ನಾಸ್ತಿಯಾಗದು,
ಕರಣಾದಿಗುಣಂಗಳು ನಾಸ್ತಿಯಾಗವು, ಕರಸ್ಥಲವು ನಾಸ್ತಿಯಾಗದು.
ಇದೆತ್ತಣ ಉಲುಹೊ ಗುಹೇಶ್ವರಾ ? ॥೧೭೨॥

೪೪೩

ಜಗ[ದ್]ವಂದ್ಯರೆಂದು ನುಡಿದು ನಡೆವರು ನೋಡಾ.
ಭವಬಂಧನದ ಕುಣಿಕೆಯ ಕಳೆಯಲರಿಯರು ನೋಡಾ.
ಭವ ತಮ್ಮ ತುಳಿ ತುಳಿದು ಕೊಂದಿತ್ತು ನೋಡಾ !
ಶಬ್ದವೇದಿಗಳೆಂದು ನುಡಿದು ನಡೆವರು ನೋಡಾ.
ನಿಃಶಬ್ದ ವೇದಿಸದಿರ್ದಡೆ, ಗುಹೇಶ್ವರ ನೋಡಿ ನಗುತ್ತಿಪ್ಪನೋಡಾ ! ॥೧೭೩॥

೪೮೪

ಲೋಕದವರನೊಂದು ಭೂತ ಹಿಡಿದಡೆ,
ಆ ಭೂತದಿಚ್ಛೆಯಲ್ಲಿ ನುಡಿವುತ್ತಿಪ್ಪರು.
ಲಾಂಛನ ಧಾರಿ ವೇಷವ ಧರಿಸಿ, ಆಸೆಯಿಂದ ಘಾಸಿಯಾಗಲೇಕಯ್ಯಾ ?
ಆನೆಯ ಚೋಹವ ತೊಟ್ಟು ಸಾಯಾಗಿ ಬೊಗಳುವ
ಮಾನವರನೇನೆಂಬೆ ಗುಹೇಶ್ವರಾ ? ॥೧೭೪॥

೪೮೫

ಏನೆಂದರಿಯರು ಎಂತೆಂದರಿಯರು.
ಬರುಮಾತಿನ ಬೊಮ್ಮವನಾಡುತ್ತಿಪ್ಪರು.
ರುದ್ರನ ನೊಸಲ ಕಣ್ಣ ಕಿಚ್ಚಿನೊಳಗೆ
ತ್ರಿಪುರವ ಸುಡಲರಿಯದೆ
ಕಾಮನ ಕಣ್ಣ ಕಿಚ್ಚಿನೊಳಗೆ ತ್ರಿಪುರವ ಸುಡುತ್ತಿಪ್ಪರು.
ಭೂಮಿಯಾಕಾಶವ ಮೆಟ್ಟಿ,
ಕಾಮಗುಣಂಗಳ ಕೂಡೆ ಕಾದಿ ಗೆಲಲರಿಯದೆ
ನೀಲಗಿರಿಯ ಮೇಲೆ ನಿಂದು
ಉಲಿವದ (ಉಲಿಯ?) ಉಯ್ಯಾಲೆಯನಾಡುತ್ತಿಪ್ಪರಯ್ಯಾ.
ಗುಹೇಶ್ವರಾ ನಿಮ್ಮನರಿದೆಹೆವೆಂಬವರೆಲ್ಲ
ಬರುದೊರೆವೋದರಯ್ಯಾ. ॥೧೭೫॥

೪೮೬

ಗಗನದ ಮೇಘಂಗಳೆಲ್ಲ ಸುರಿದು[ವು] ಭೂಮಿಯ ಮೇಲೆ.
ಭೂಮಿ ದಣಿಯುಂಡು ಸಸಿಗಳೆಲ್ಲಾ ಬೆಳೆದವು.
ಬಹುವಿಕಾರದಿಂದ ಬೆಳೆದ ಸಸಿ[ಯ], ವಿಕಾರದಿಂದ ಗ್ರಹಿಸುವ
ಕಾಮವಿಕಾರಿಗಳು, ಲಿಂಗವನೆತ್ತ ಬಲ್ಲರು ಗುಹೇಶ್ವರಾ. ॥೧೭೬॥

೪೮೭

ಮರನುಳ್ಳನ್ನಕ್ಕ ಎಲೆ ಉಲಿವುದು ಮಾಬುದೆ ?
ಶರೀರವುಳ್ಳನ್ನಕ್ಕ ವಿಕಾರ ಮಾಬುದೆ ?
ಅಯ್ಯಾ ಸುಳುಹುಳ್ಳನ್ನಕ್ಕ ಸೂತಕ ಹಿಂಗೂದೆ
ಗುಹೇಶ್ವರಾ ? ॥೧೭೭॥

೪೮೮

ಅರಿವಿನ ಬಲದಿಂದ ಕೆಲಬರು
ಅರಿಯದವರ ಗೆಲಬೇಕೆಂದು,
ಬರುಮಾತಿನ ಉಯ್ಯಲೆಯನೇರಿ, ಒದೆದು ಒರಲಿ ಕೆಡೆವ ದರಿದ್ರರು !
ಅರಿವು ತೋರದೆ ಇರಬೇಕು – ಕಾಯನಿರ್ಣಯ ನಿಃಪತಿಯೆಂಬಾತನು.
ಸೋಂಕಿನ ಸೋಜಿಗವೆಂಬ ಪರಿಣತೆ ಫಲಿಸಬೇಕು,
ಅರಿವು ತೋರದೆ ಎರಡೆಂಬ ಭಿನ್ನವೇಷವ ತೊಟ್ಟು
ಡಂಬಕವ ನುಡಿದೆಹೆವೆಂಬ ಉದ್ದಂಡರ
ಗುಹೇಶ್ವರ ಕಂಡರೆ ಕನಲುವ. ॥೧೭೮॥

೪೮೯

ಹೋಮವ ಮಾಡುವರ ಕಂಡೆ;
ಹೊಗೆಯ ನಿಲಿಸುವರ ಕಾಣೆ.
ದೂರ ದಾರಿ ನಡೆವರ ಕಂಡೆ;
ಕಾಲುಗಳ ನುಂಗುವರ ಕಾಣೆ.
ಆಲು (ರು?)ತ್ತ ಬೊಬ್ಬೆಗೊಟ್ಟು ರಣದೊಳಗೆ ಅಳಿದು
ಮುಂಡ ಮುಂದೆ ನಡೆದಾಡುವರ ಕಂಡೆ,
ಹರಿದ ಶಿರವ ಹಿಡಿದುಕೊಂಡು,
ಕುಣಿದಾಡುವರ ಕಾಣೆ ಗುಹೇಶ್ವರಾ. ॥೧೭೯॥

೪೯೦

ಹೊನ್ನ ತೂಗಿದ ತ್ರಾಸುಕಟ್ಟಳೆ ಹೊನ್ನಿಂಗೆ ಸರಿಯುಪ್ಪುದೆ?
ಸನ್ನಹಿತರಾದೆವೆಂಬ ನುಡಿಗೆ ನಾಚರು ನೋಡಾ,
ಕನ್ನದಲಿ ಸವೆದ ಕಬ್ಬುನದಂತೆ,
ಮುನ್ನ ಹೋದ ಹಿರಿಯರು ಲಿಂಗದ ಸುದ್ದಿಯನರಿಯರು.
ಇನ್ನಾರು ಬಲ್ಲರು ಹೇಳಾ ಗುಹೇಶ್ವರಾ? ॥೧೮೦॥

೪೯೧

ಶಬ್ದಿಯಾದಾತ ತರುಗಳ ಹೋತ, ನಿಶ್ಶಬ್ದಿಯಾದಾತ ಪಾಷಾಣವ ಹೋತ.
ಕೋಪಿಯಾದಾತ ಅಗ್ನಿಯ ಹೋತ. ಶಾಂತನಾದಾತ ಜಲವ ಹೋತ.
ಬಲ್ಲೆನೆಂಬಾತ ಇಲ್ಲವೆಯ ಹೋತ. ಅರಿಯೆನೆಂಬಾತ ಪಶುವ ಹೋತ.

ಇದು ಕಾರಣ – ಅರಿಯೆನೆನ್ನದೆ ಬಲ್ಲೆನೆನ್ನದೆ ಅರುಹಿನ ಕುರುಹನಳಿದುಳಿದು
ಗುಹೇಶ್ವರನೆಂಬ ಲಿಂಗವ ಹೋತವರನಾರನೂ ಕಾಣೆ. ॥೧೮೧॥

೪೯೨

ನಾದದ ಉತ್ಪತ್ತಿ ಸ್ಥಿತಿ ಲಯವನು
ಹೇಳಿದಡೇನು ಕೇಳಿದಡೇನು, ಎಲೆ ಮರುಳೆ !
ಬಿಂದು ದಳದ ಉತ್ಪತ್ತಿ ಸ್ಥಿತಿ ಲಯವನು
ಹೇಳಿದಡೇನು ಕೇಳಿದಡೇನು ಎಲೆ ಮರುಳೆ !
ಮಧ್ಯದಳದ ಉತ್ಪತ್ತಿ ಸ್ಥಿತಿ ಲಯವನು
ಹೇಳಿದಡೇನು ಕೇಳಿದಡೇನು ಎಲೆ ಮರುಳೆ !
ಮುಗಿಲಗಲದ ಅಂಬರ ವಾಯು ಅಗ್ನಿ ಜಲ ಧರೆಯ ಹೊತ್ತುಕೊಂಡು
ಅವ, ಹೇಳಿದಡೇನು ಕೇಳಿದಡೇನು ಎಲೆ ಮರುಳೆ !
ಗುಹೇಶ್ವರಲಿಂಗದ ಬಾರಿಗೊಳಗಾಗಿ,
ಇವೆಲ್ಲವನುಂಟುಮಾಡಲರಿಯೆನಾಗಿ – ಎನಗಿಲ್ಲವೆನುತಿರ್ದೆನಯ್ಯಾ. ॥೧೮೨॥

೪೯೩

ಮುಂದಳೂರಿಗೆ ಬಟ್ಟೆ ಇದೇ ಹೋಗೆಂದಡೆ
ಅಂಧಕನೇನು ಬಲ್ಲನು ಹೇಳಾ ?
ಸಂಗ್ರಾಮದಲ್ಲಿ ಓಡಿದ ಹಂದೆ ಗೆಲಬಲ್ಲನೆ ಹೇಳಾ ?
ನಿಂದ ನಿಲವಿನ (ನೀರಿನ ?) ಮಡುವ ಕಂದನೀಸಾಡ ಬಲ್ಲನೆ ಹೇಳಾ ?
ಗುಹೇಶ್ವರನೆಂಬ ನಿರಾಳದ ಘನವ
ಪಂಚೇಂದ್ರಿ[ಯ]ಕನೆತ್ತ ಬಲ್ಲನು ಹೇಳಾ? ॥೧೮೩॥

೪೯೪

ಗಗನದ ಮೇಘಂಗಳು ಸುರಿದಲ್ಲಿ ಒಂದು ಹಿರಿಯ ಕೆರೆ ತುಂಬಿತ್ತು.
ಆ ಕೆರೆಗೆ ಏರಿ ಮೂರು;
ಅಲ್ಲಿ ಒಳಗೆ ಹತ್ತು ಬಾವಿ ಹೊರಗೆ ಐದು ಬಾವಿ !
ಆ ಏರಿಯೊಳಗೆ ಒಂಬತ್ತು ತೂಬನುಚ್ಚಿದಡೆ
ಆಕಾಶವೆಲ್ಲ ಜಲಮಯವಾಗಿತ್ತು !
ತುಂಬಿದ ಜಲವನುಂಡುಂಡು ಬಂದು
ಅಂಜದೆ ನುಡಿವ ಭಂಡಯೋಗಿಗಳನೇನೆಂಬೆ ಗುಹೇಶ್ವರಾ. ॥೧೮೪॥

೪೯೫

ರೂಪ[ನೆ] ಕಂಡರು, ನಿರೂಪ[ನೆ] ಕಾಣರು.
ಅನುವನೆ ಕಂಡರು, ತನುವನೆ ಕಾಣರು.
ಆಚಾರವನೆ ಕಂಡರು, ವಿಚಾರವನೆ ಕಾಣರು.
ಗುಹೇಶ್ವರಾ–ನಿಮ್ಮ ಕುರುಹನೆ ಕಂಡರು,
ಕೂಡಲರಿಯದೆ ಕೆಟ್ಟರು ! ॥೧೮೫॥

೪೯೬

ಇರುಳೊಂದು ಮುಖ ಹಗಲೊಂದು ಮುಖ
ಕಾಯವೊಂದು ಮುಖ ಜೀವವೊಂದು ಮುಖ,
ಬುದ್ಧಿಯನರಿಯದಿದೆ ನೋಡಾ !
ಪ್ರಾಣಲಿಂಗವೆಂಬ ಭ್ರಾಂತು ನೋಡಾ !
ಇದು ಕಾರಣ–ಮೂರುಲೋಕವೆಯ್ದೆ
ಬರುಸೂರೆವೋಯಿತ್ತು ಗುಹೇಶ್ವರಾ. ॥೧೮೬॥

೪೯೭

ಭಾವದಲ್ಲಿ ಭ್ರಮಿತರಾದವದ
ಸೀಮೆಯೇನು ? ನಿಸ್ಸೀಮೆಯೇನು ?
ವಚನದ ರಚನೆಯ ರಂಜನೆಯ ಲೀಲೆಯನಾಡುವರು.
ಗುಹೇಶ್ವರನಿಪ್ಪ ಗುಪ್ತವೆಂತೆಂದರಿಯರು. ॥೧೮೭॥

೪೯೮

ಅಘಟಿತ ಘಟಿತನೆ ವಿಪರೀತ ಚರಿತ್ರನೆ.
ಸಾವರ ಕೈಯಲ್ಲಿ ಪೂಜೆಗೊಂಬರೆ ಲಿಂಗಯ್ಯಾ ?
ಸಾವರ ನೋವರ ಕೈಯಲ್ಲಿ ಪೂಜೆಗೊಂಬುದು
ಲಜ್ಜೆ ಕಾಣಾ – ಗುಹೇಶ್ವರಾ. ॥೧೮೮॥

೪೯೯

ಅಪರಿಮಿತ ಕತ್ತಲೆಯೊಳಗೆ ಪರಿಮಿತದ ಬೆಳಗನಿಕ್ಕಿದಡೆ
ಬೆಳಕೂ ಅದೆ, ಕತ್ತಲೆಯೂ ಅದೆ !
ಇದೇನು ಚೋದ್ಯವೊ? ಒಂದಕ್ಕೊಂದಂಜದು !

ಆನೆಯೂ ಸಿಂಹವೂ ಒಂದಾಗಿ ಉಂಬುದ ಕಂಡು
ಬೆರಗಾದೆನು ಕಾಣಾ – ಗುಹೇಶ್ವರಾ. ॥೧೮೯॥

೩೦೦

ತತ್ವವೆಂಬುದ ನೀನೆತ್ತ ಬಲ್ಲೆಯೊ ?
ಸತ್ತು ಮುಂದೆ ನೀನೇನ ಕಾಬೆಯೊ ?
ಇಂದೆ ಇಂದೆಯೊ ಇಂದೆ ಮಾನವಾ
ಮಾತಿನಂತಿಲ್ಲ ಶಿವಾಚಾರ, ದಸರಿದೊಡಕು ಕಾಣಿರಣ್ಣಾ.
ರಚ್ಚೆಯ ಮಾತಲ್ಲ ಬೀದಿಯ ಮಾತಲ್ಲ.
ಏಕೋ ರಾತ್ರಿಯ ಬಿಂದು ನೋಡಾ !
ಗುಹೇಶ್ವರನ ಕೂಡಿದ ಕೂಟ
ಇಂದು ಸುಖ, ಮುಂದೆ ಲೇಸು ! ॥೧೯೦॥

೩೦೧

ಪೃಥ್ವಿ ಅಪ್ಪು ತೇಜ ವಾಯು ಆಕಾಶದಲ್ಲಿ
ಬೆಳೆಯುತ್ತಿದ್ದಡೇನು ನೋಡಾ.
ಘನ ಘನವನರಿದೆನೆಂಬ ಮರುಳು ಮಾನವರ ನೋಡಾ.
ನಿರ್ಣಯವಿಲ್ಲದ ನಿರ್ವಿಕಾರ ಗುಹೇಶ್ವರನೆಂಬ ಮಹಾಘನವ
ತಿಳಿಯರು ನೋಡಾ ! ॥೧೯೧॥

೩೦೨

ಎಲ್ಲ ಎಲ್ಲವನರಿಯಬಹುದು: ಸಾವನರಿಯಬಾರದು.
ಸರ್ವವಿದ್ಯೆ ಸಕಲವ್ಯಾಪ್ತಿಯನರಿಯಬಹುದು; ಸಾವನರಿಯಬಾರದು.
ಹರಿ ಬ್ರಹ್ಮ ಕಾಲ ಕಾಮ ದಕ್ಷಾದಿ ದೇವ ದಾನವ ಮಾನವರಿಗೆಲ್ಲಗೆಯೂ ಸಾವು !
ಮಹಾಪುರುಷರಿಗೆಯೂ ಸಾವು !
ಶಿವ ಶಿವಾ, ಈ ಸಾವನರಿಯದೀ ಲೋಕ !
ಪ್ರಪಂಚವ ಮರೆದು ಲಿಂಗದಲ್ಲಿ ನೆನಹು ನೆಲೆಗೊಂಡಡೆ
ಆ ಮಹಿಮಂಗೆ ಸಾವಿಲ್ಲ.
ಈ ಸಾವನರಿಯದ ಅರೆಮರುಳಗಳ ಅರಿವು
ಮಾನ (ಮಹಾ?) ಹಾನಿ ಕಾಣಾ ಗುಹೇಶ್ವರಾ. ॥೧೯೨॥

೫೦೩

ಆಗ ಹುಟ್ಟಿ ಬೇಗ ಸಾವ ಕಾಯಗೊಂಡ ಮಾನವಾ,
ನೀ ದೇವರೆನಿಸಿಕೊಂಬುದೊಂದು ಆವುದಂತರ ಹೇಳಾ ?
ದೇವರು ಸಾವಡೆ, ದೇವರಿಗೂ ಸಾವರಿಗೂ ಆವುದಂತರ ಹೇಳಾ ?
ದೇವರಿಗೆ ದೇವಲೋಕ, ಮಾನವರಿಗೆ ಮರ್ತ್ಯಲೋಕ,
ಗುಹೇಶ್ವರ ಅಲ್ಲಯ್ಯಂಗೆ ಇನ್ನಾವ ಲೋಕವೂ ಇಲ್ಲ. ॥೧೯೩॥

೫೦೪

ಅತ್ತಲಿತ್ತಲು ಕಾಣಲಿಲ್ಲ, ಬಯಲ ಧಾಳಿ ಮುಟ್ಟಿತ್ತಲ್ಲಾ !
ಸರಳಮಂಡಲ ಮಂಜಿನ ಕಾಳಗತ್ತಲೆ ಕವಿಯಿತ್ತು.
ರವಿಯ ರಥದಚ್ಚು ಮುರಿಯಿತ್ತು !
ಶಶಿ ಅಂಶದ ನಿಲವನು ರಾಯ (ರಾಹು ?) ಗೆದ್ದುದ ಕಂಡು
ಹಿರಿಯರು ಹೊಲಬುಗೆಟ್ಟರು ಗುಹೇಶ್ವರಾ. ॥೧೯೪॥

೫೦೫

ಸನಕ ಸನಂದಾದಿ ಮುನಿಜನಂಗಳೆಲ್ಲರೂ, ಭಸ್ಮಾಂಗಿಗಳೆಲ್ಲರೂ–
ಇವರು ಸತ್ಯರೆಂಬುದು ಹುಸಿ, ನಿತ್ಯರೆಂಬುದು ಹುಸಿ,
ಸತ್ತರೆಂಬುದು ದಿಟ ಗುಹೇಶ್ವರಾ ! ॥೧೯೫॥

೫೦೬

ಹನ್ನೆರಡುಯುಗ ಪ್ರಳಯವಾದಲ್ಲಿ, ಆದಿಬ್ರಹ್ಮಂಗೆ ಪ್ರಳಯ.
ಆದಿಬ್ರಹ್ಮನ ಪ್ರಳಯ ಅಳಿದುಳಿದಲ್ಲಿ, ಮೀನಜರಿಗೊಂದು ಹಿಂಪಿನ ಪ್ರಳಯ.
ಮೀನಜರಿಗೆ ಮೀನ ಪ್ರಳಯವಾದಲ್ಲಿ,
ಅಸಹಸ್ರನೆಂಬ ಗಣೇಶ್ವರಂಗೆ ಒಂದು ಪ್ರಳಯ.
ಆ ಅಸಹಸ್ರನೆಂಬ ಗಣೇಶ್ವರನು ಪ್ರಳಯದಲ್ಲಿ ಅಳಿದುಳಿದಲ್ಲಿ,
ಅಕ್ಷಯನೆಂಬ ಗಣೇಶ್ವರಂಗೆ ಒಂದು ತಲೆಯ ಪ್ರಳಯ
ಆ ಅಕ್ಷಯನೆಂಬ ಗಣೇಶ್ವರಂಗೆ ಅರುವತ್ತುಕೋಟಿ ತಲೆ.
ಇಂತಹ ರುದ್ರಾವತಾರ ಹಲವಳಿದಡೆ,
ಗುಹೇಶ್ವರಲಿಂಗವನೆಂದೂ ಅರಿಯ ! ॥೧೯೬॥

೫೦೭

ಖೇಚರರಾಗಲಿ ಭೂಚರರಾಗಲಿ ಲಾಂಛನಧಾರಿಯಾಗಲಿ,
ಮರಣವಾರಿಗೂ ಮನ್ನಣೆಯಿಲ್ಲ!
ಸನಕ ಸನಂದಾದಿಗಳಿಗೂ ಮರಣ ಮನ್ನಣೆಯಿಲ್ಲ.
ಇದು ಕಾರಣ – ಗುಹೇಶ್ವರಾ ನಿಮ್ಮ ಶರಣರು
ಕಾಲನ ಬಾರಿಗೆ ಕಲ್ಪಿತರಾಗರು ! ॥೧೯೭॥

೫೦೮

ಕಾಮಿಸುವ ಕಲ್ಪಿಸುವ ಬ್ರಹ್ಮನೆಂಬವ ವ್ರತಗೇಡಿ,
ವಿಷ್ಣುವೆಂಬವ ಸತ್ತು ಬಿದ್ದ, ರುದ್ರನೆಂಬವ ಅಬದ್ಧ ಅವಿಚಾರಿ!
ಅವಿಚಾರದಲ್ಲಿ ಎಲ್ಲರ ಕೊಂದ ಕೊಲೆ, ನಿಮ್ಮ ತಾಗುವುದು ಗುಹೇಶ್ವರಾ. ॥೧೯೮॥

೫೦೯

ಮಹಾಮಂಜಿನ ಸಂಗ್ರಹದ ಘಟಾಘಟಿತರವರೆಲ್ಲರು
ಕುಂಜರನ ಪಂಜರದಲ್ಲಿ ಸಂಜೀವಿತರಾಗಿಪ್ಪರು !
ಎಂಜಲವನುಂಡು ಬಂದು ಅಂಜದೆ ನುಡಿವುತ್ತಿಪ್ಪರು.
ರಂಜನೆಗೊಳಗಪ್ಪುದೆ ? –ಆಗರದ ಸಂಚವನರಿಯರು !
ರಂಜಕನೂ ಅಲ್ಲ, ಭುಂಜಕನೂ ಅಲ್ಲ,
ಗುಹೇಶ್ವರಾ ನಿಮ್ಮ ಶರಣ ಸಂಜೀವನರಹಿತನು ! ॥೧೯೯॥

೫೧೦

ಆದಿ ತ್ರೈಯುಗದಲ್ಲಿ ದೇವ ದಾನವ ಮಾನವರು
ಮಾಯಾಮೋಹದಲ್ಲಿ ಹುಟ್ಟಿ ತೊಳಲಿ ಬಳಲುತ್ತೈದಾರೆ !
ಆವ ವೇಷವಾದಡೇನು? ತಾಮಸಧಾರಿಗಳು,
ಕಾಮ ಕ್ರೋಧ ಲೋಭ ಬಿಡದ ನಾನಾ ವಿಧದ ಡಂಬಕರು !
ಹೂಳದ ಹುಣ್ಣಿಂಗೆ ಆರಯ್ಯಾ ಮದ್ದನಿಕ್ಕುವರು ?
ಇದೇನು ಗುಹೇಶ್ವರ? ಸೋರೆಯ ಬಣ್ಣದ ಹಿರಿಯರು ! ॥೨೦೦॥

೫೧೧

ಯುಗ ಜುಗವ ಬಲ್ಲೆನೆಂಬವರು,
ನಿಚ್ಚಕ್ಕೆ ನಿಚ್ಚ ಬಪ್ಪ ಚಿಕ್ಕುಟು ಸಾವನರಿಯರು.

ಬಾಯ ಬಾಗಿಲ [ಉಲುಹು], ತಲೆಹೊಲದ ಹುಲ್ಲೊಣಗಿತ್ತು.
ನಿಮ್ಮನುವಿನಲ್ಲಿರ್ದ ಕಾಣಾ ಗುಹೇಶ್ವರಾ. ॥೨೦೧॥

೫೧೨

ರುದ್ರನೆಂಬಾತನೊಬ್ಬ ಗಣೇಶ್ವರನು, ಭದ್ರನೆಂಬಾತನೊಬ್ಬ ಗಣೇಶ್ವರನು.
ಶಂಕರನೆಂಬಾತನೊಬ್ಬ ಗಣೇಶ್ವರನು, ಶಶಿಧರನೆಂಬಾತನೊಬ್ಬ ಗಣೇಶ್ವರನು.
ಪೃಥ್ವಿಯೆ ಪೀಠ ಆಕಾಶವೆ ಲಿಂಗ – ಅಂತಹ ಆತನೊಬ್ಬ ಗಣೇಶ್ವರನು.
ಬಲ್ಲಾಳನ ವಧುವ ಬೇಡಿದಾತನೊಬ್ಬ ಗಣೇಶ್ವರನು.
ಸಿರಿಯಾಳನ ಮಗನ ಭಿಕ್ಷವ ಬೇಡಿದಾತನೊಬ್ಬ ಗಣೇಶ್ವರನು.
ಬ್ರಹ್ಮಕಪಾಲ ವಿಷ್ಣುಕಂಕಾಳವನಿಕ್ಕಿ ಆಡುವಲ್ಲಿ
ನೀಲಕಂಠನೆಂಬಾತನೊಬ್ಬ ಗಣೇಶ್ವರನು. –
ಇವರೆಲ್ಲರು ನಮ್ಮ ಗುಹೇಶ್ವರಲಿಂಗದೊಳಡಗಿಪ್ಪರು. ॥೨೦೨॥

೫೧೩

ದೇವಲೋಕದವ[ರೆಲ್ಲರ] ವ್ರತಗೇಡಿಗಳೆಂಬೆ.
ಮರ್ತ್ಯಲೋಕದವ[ರೆಲ್ಲರ] ಭಕ್ತದ್ರೋಹಿಗಳೆಂಬೆ.
ದೇವಸಂಭ್ರಮ ಗಣಪದವಿಯ ಕಂಡವರೆಲ್ಲರ
ಕುಂಭಕರ್ಣನಂತೆ ಅತಿನಿದ್ರಿಗಳೆಂಬೆ.
ಅನಂತಶೀಲರ ಕಂಡಡೆ ಕೈಕೂಲಿಕಾರರೆಂಬೆ –
ಗುಹೇಶ್ವರಾ ಲಿಂಗೈಕ್ಯವನರಿಯರಾಗಿ. ॥೨೦೩॥

೫೧೪

ಹರಿ ಹೊಲಬನರಿಯ, ಬ್ರಹ್ಮ ಮುಂದನರಿಯ,
ರುದ್ರ ಲೆಕ್ಕವ ಮರೆದು ಜಪವನೆಣಿಸುತ್ತೈದಾನೆ.
ಈಶ್ವರ ಪವನಯೋಗದಲ್ಲಿ ಮಗ್ನನಾದ.
ಸದಾಶಿವ ಭಾವದಲ್ಲಿ ಭ್ರಮಿತನಾದ.
ಒಂದಂಡಜದೊಳಗಣ ಬಾಲಕರೈವರು,
ನಿಮ್ಮನೆತ್ತ ಬಲ್ಲರು ಗುಹೇಶ್ವರಾ. ॥೨೦೪॥

೫೧೫

ಕಾಯವೆ ಸತ್ತು ಮಾಯವೆ ಉಳಿಯಿತ್ತು.
ಎರಡರ ಸುಖದುಃಖವನರಿಯರು ನೋಡಾ.

ಅದೇನೆಂದರಿಯರು ಅದೆಂತೆಂದರಿಯರು ನೋಡಾ.
ಹಿರಿಯರೆಲ್ಲಾ ವೃಥಾಯ ಹೋದರು ನೋಡಾ.
ಕಣ್ಣ ಮುಂದಣ ಕಪ್ಪ ಕಳೆಯಲರಿಯರು ನೋಡಾ.
ಗುಹೇಶ್ವರನೆಂಬ ಶಬ್ದಕ್ಕೆ ನಾಚರು ನೋಡಾ ! ॥೨೦೫॥

೫೧೬

ಅಮರದ ಹೊಲಬನರಿಯದೆ ಜಗ ಬರಡಾಯಿತ್ತು.
ಅಂಗದ ಹೊಲಬನರಿಯದೆ ಯೋಗ ಭಂಗವಾಯಿತ್ತು.
ಸಂಗದ ಹೊಲಬನರಿಯದೆ ಶರಣರು ಭಂಗಿತರಾದರು.
ಲಿಂಗದ ಹೊಲಬನರಿಯದೆ ಭಕ್ತ ಶೀಲವಂತನಾದ.
ಆದಿ ಮಧ್ಯಾವಸಾನದಲ್ಲಿ ಗುಹೇಶ್ವರನೆಂಬ ಲಿಂಗವು,
ಅರಿವಿನ ಮರೆಯಲ್ಲಿಹುದನಾರೂ ಅರಿಯರಲ್ಲಾ ! ॥೨೦೬॥

೫೧೭

ಅರಿಯದಂತಿರಲೊಲ್ಲದೆ, ಅರಿದು ಕುರುಹಾದೆಯಲ್ಲಾ !
ಹಿರಿಯರೆಲ್ಲರು ನೆರೆದು ನಿಮ್ಮ ಕಟ್ಟಿದರೆ ಅಯ್ಯಾ,
ಉಪಚಾರಕ್ಕೋಸುಗ !
ಸಾವಿಂಗೆ ಸಂಗಡವಾದೆಯಲ್ಲಾ – ಗುಹೇಶ್ವರಾ ! ॥೨೦೭॥

೫೧೮

ಅಜ್ಞಾನಿಯಾದವಂಗೆ ಅರಿವು ತಾನೆಲ್ಲಿಯದೊ ?
ಸುಜ್ಞಾನಿಯಾದವಂಗೆ ಮರಹು ತಾನೆಲ್ಲಿಯದೊ ?
ನಾನರಿದೆನೆಂಬಾತ ಇದಿರ ಕೇಳಲುಂಟೆ ?
ಭ್ರಾಂತಿನ ಭ್ರಮೆಯೊಳಗೆ ಬಳಲುತ್ತಿರಲು
ಮಾತಿನ ಮಾತಿನೊಳಗೆ ಅರಿವೆಂಬುದುಂಟೆ ?
ಸೂತಕ ಹಿಂಗದೆ ಸಂದೇಹವಳಿಯದೆ,
ಮುಂದಣ ಸೂಕ್ಷ್ಮವ ಕಾಬ ಪರಿಯೆಂತೊ?
ಜ್ಯೋತಿಯ ಬಸಿರೊಳಗೆ ಜನಿಸಿದ
ಕಾಂತಿಯೂಥ(ಯುತ?) ಬೆಳಗು ಗುಹೇಶ್ವರಾ ನಿಮ್ಮ ಶರಣ ! ॥೨೦೮॥

೫೯

ಇರುಳ ನುಂಗಿತ್ತು, ಇರುಳಿಲ್ಲ; ಹಗಲ ನುಂಗಿತ್ತು ಹಗಲಿಲ್ಲ.
ಅರಿವ ನುಂಗಿತ್ತು ಅರಿವಿಲ್ಲ, ಮರಹ ನುಂಗಿತ್ತು ಮರಹಿಲ್ಲ.
ಕಾಯವ ನುಂಗಿತ್ತು ಕಾಯವಿಲ್ಲ, ಜೀವವ ನುಂಗಿತ್ತು ಜೀವವಿಲ್ಲ.
ಇವೆಲ್ಲವ ನುಂಗಿತ್ತು – ಇದೇನಯ್ಯಾ, ಸಾವ ನುಂಗದು ಗುಹೇಶ್ವರಾ ? ॥೨೯॥

೩೦

ಅಡಿಗಡಿಗೆ ತೊಳೆದು ಕುಡಿವಡೆ ಹೊಟ್ಟೆಯ ಜಲಗರಕುತ್ತ ಬೆಳೆಯಿತ್ತೆ ?
ಅಚ್ಚ ಪ್ರಸಾದಿಯಾದಡೆ ಹಿಂದೆ ಪರಿಯಾಣ ಉಳಿವುದೆ ?
ಇವರೆಲ್ಲರು ನಿಮ್ಮ ಪೂಜಿಸಿ ವ್ರತಗೇಡಿಗಳಾದರು.
ನಾ ನಿಮ್ಮ ಪೂಜಿಸಿ ಬದುಕಿದೆನು ಗುಹೇಶ್ವರಾ ! ॥೩೦॥

೩೧

ಮಜ್ಜನಕ್ಕೆರೆವಡೆ ಭೂತವಿಕಾರ. ಪ್ರಮಥ ಗಣಂಗಳೆಲ್ಲರೂ ಪ್ರೇತರು.
ವೀರಭದ್ರ ಗಣಂಗಳೆಲ್ಲರೂ ಬ್ರಹ್ಮರಾಕ್ಷಸರು.
ಅರ್ಧನಾರೀಶ್ವರರೆಲ್ಲರೂ ಚಿಕ್ಕಮಕ್ಕಳ ಮೇಲೆ, ತಪ್ಪ ಸಾಧಿಸಿ ಕಾಡಿ ಉಂಬರು. –
ಈ ನಾಲ್ಕು ಸ್ಥಾನದೊಳಗೆ ಆವುದೂ ಅಲ್ಲ
ಗುಹೇಶ್ವರಾ ನಿಮ್ಮ ಲಿಂಗೈಕ್ಯವು ! ॥೩೧॥

೩೨

ಭಕ್ತಿಯೆಂಬುದು ಯುಕ್ತಿಯೊಳಗು, ಪೂಜೆಯೆಂಬುದು ನಿರ್ಮಾಲ್ಯದೊಳಗು.
ಪ್ರಸಾದವೆಂಬುದು ಓಗರದೊಳಗು, ಆಚಾರವೆಂಬುದು ಅನಾಚಾರದೊಳಗು.
ಧರ್ಮವೆಂಬುದು ಅಧರ್ಮದೊಳಗು, ಸುಖವೆಂಬುದು ದುಃಖದೊಳಗು.
ವ್ರತವೆಂಬುದು ವೈರಾಗ್ಯದೊಳಗು, ನೇಮವೆಂಬುದು ಉದ್ದೇಶದೊಳಗು.
ಅಹಿಂಸೆಯೆಂಬುದು ಹಿಂಸೆಯೊಳಗು! – ಇವಾವಂಗವೂ ಇಲ್ಲದೆ
ಗುಹೇಶ್ವರಾ ನಿಮ್ಮ ಶರಣ ಸುಖಿಯಾಗಿರ್ದನು! ॥೩೨॥

೩೩

ಭಕ್ತನೆಂಬವ ಸೂತಕಿ. ಲಿಂಗೈಕ್ಯನೆಂಬವ ವ್ರತಗೇಡಿ.
ಶರಣಸತಿ ಲಿಂಗಪತಿ ಎಂಬ ಶಬ್ದ ಸರ್ವಗುಣಸಾಹಿತ್ಯ ಎಂಬಾತ
ಕರ್ಮೇಂದ್ರಿಯ ಭೋಗಕ್ಕೆ ಬಾರದ ಭೋಗಿ.

ಗುಹೇಶ್ವರಾ ನಿಮ್ಮ ಶರಣ,
ಆವ ಭೀತನೂ ಅಲ್ಲ ಆವ ಕರ್ಮಿಯೂ ಅಲ್ಲ. ॥೨೧೩॥

೫೨೪

ಭವಿಯೆಂಬುದು ಹುಸಿ, ಭಕ್ತಿಯೆಂಬುದು ಉಪದೇಶ.
ಶೀಲವೆಂಬುದು ಸಂಕಲ್ಪ, ಸಮತೆಯೆಂಬುದು ಸೂತಕ.–
ಇಂತೀ ಚತುರ್ವಿಧದೊಳಗಿಲ್ಲ,
ಗುಹೇಶ್ವರಾ ನಿಮ್ಮ ಶರಣ ನಿಸ್ಸೀಮ! ॥೨೧೪॥

೫೨೫

ಊರೊಳಗೊಬ್ಬ ದೇವ, ಮಡುವಿನಲೊಬ್ಬ ದೇವ,
ಅಡವಿಯಲೊಬ್ಬ ದೇವ, ಮಡಿಲಲೊಬ್ಬ ದೇವ.
ನೀರು ನೀರ ಕೂಡಿ, ಬಯಲು ಬಯಲ ಕೂಡಿ
ನರನೆಂಬ ದೇವ ತಾ ನಿರಾಳವೊ!
ಲಿಂಗವೆಂಬುದೊಂದು ಅನಂತ[ದ] ಹೆಸರು,
ಗುಹೇಶ್ವರನೆಂಬುದದೇನೊ ? ॥೨೧೫॥

೫೨೬

ತನುವಿನ ಕೊರತೆಗೆ ಸುಳಿಸುಳಿದು , ಮನದ ಕೊರತೆಗೆ ನೆನೆನೆನೆದು,
ಭಾವದ ಕೊರತೆಗೆ ತಿಳಿತಿಳಿದು, ಶಬ್ದದ ಕೊರತೆಗೆ ಉಲಿಮಲಿದು,
ಗುಹೇಶ್ವರನೆಂಬ ಲಿಂಗವು ಮನದಲ್ಲಿ ನೆಲೆಗೊಳ್ಳದಾಗಿ ! ॥೨೧೬॥

೫೨೭

ಹುಸಿಯುಳ್ಳಾತ ಭಕ್ತನಲ್ಲ ಬಾಧೆಯುಳ್ಳಾತ ಜಂಗಮವಲ್ಲ,
ಆಸೆಯುಳ್ಳಾತ ಶರಣನಲ್ಲ.
ಇಂತಪ್ಪ ಆಸೆ ಹುಸಿ ಬಾಧೆಯ ನಿರಾಕರಿಸಿ ಇರಬಲ್ಲಡೆ–
ಗುಹೇಶ್ವರಾ ನಿಮ್ಮ ಶರಣ. ॥೨೧೭॥

೫೨೮

ಆಶೆಯ ವೇಷವ ಧರಿಸಿ ಭಾಷೆ ಪಲ್ಲಟವಾದರೆ
ಎಂತಯ್ಯಾ ಶರಣಪಥ ವೇದ್ಯವಹುದು ?
ತ್ರಿಭುವನದ ಮಸ್ತಕದ ಮೇಲಿಪ್ಪ ಮೂರು ಗಿರಿಯ ಹುಡಿಗುಟ್ಟದನ್ನಕ್ಕರ

ಎಂತಯ್ಯಾ ಶಿವಪಥ ಸಾಧ್ಯವಹುದು ?
ಭದ್ರೆ ನಿಭದ್ರೆಯೆಂಬವರ ಮೂಲವ ನಾಶಮಾಡದನ್ನಕ್ಕರ,
ಎಂತಯ್ಯಾ ಲಿಂಗೈಕ್ಯವು?
ಅತಳಲೋಕದಲ್ಲಿ ಕುಳ್ಳಿರ್ದು, ಬ್ರಹ್ಮಲೋಕವ ಮುಟ್ಟಿದೆನೆಂಬವರೆಲ್ಲ
ಭವಭಾರಕ್ಕೊಳಗಾದುದ ಕಂಡು
ನಾನು ಬೆರಗಾದೆನು ಗುಹೇಶ್ವರಾ. ॥೨೧೮॥

೫೨೯

ತನು ಬತ್ತಲಿದ್ದರೇನೊ ಮನ ಶುಚಿಯಾಗದನ್ನಕ್ಕರ ?
ಮಂಡೆ ಬೋಳಾದಡೇನೊ, ಭಾವ ಬಯಲಾಗದನ್ನಕ್ಕರ ?
ಭಸ್ಮವ ಹೂಸಿದಡೇನೊ,
ಕರಣಾದಿ ಗುಣಂಗಳನೊತ್ತಿ ಮೆಟ್ಟಿ ಸುಡದನ್ನಕ್ಕರ ?
ಇಂತೀ ಆಶೆಯ ವೇಷದ ಭಾಷೆಗೆ,
ಗುಹೇಶ್ವರಾ ನೀ ಸಾಕ್ಷಿಯಾಗಿ ಛೀ ಎಂಬೆನು. ॥೨೧೯॥

೫೩೦

ಭಸ್ಮವ ಹೂಸಿ ಬತ್ತಲೆಯಿದ್ದಡೇನು ಬ್ರಹ್ಮಚಾರಿಯೇ ?
ಅಶನವನುಂಡು ವ್ಯಸನವ ಮರೆದಡೇನು ಬ್ರಹ್ಮಚಾರಿಯೆ ?
ಭಾವ ಬತ್ತಲೆಯಿರ್ದು ಮನ ದಿಗಂಬರವಾಗಿರ್ದಡೆ
ಅದು ಸಹಜನಿರ್ವಾಣವು ಕಾಣಾ ಗುಹೇಶ್ವರಾ. ॥೨೨೦॥

೫೩೧

ಶರಣಸಂಬಂಧವನರಿದವನು ಎಂತಿರ್ದಡೇನಯ್ಯಾ ?
ತಿಳಿದು ನೋಡಿ ನಡೆಯದಿರ್ದಡೆ ಭಕ್ತಿವಿರೋಧ.
ತೆರನನರಿದು ಮರವೆಯಳಿದು ಸುಳಿವನಾಗಿ
ಉಪಜೀವಿಕನಲ್ಲ ಕೇಳಿರಣ್ಣಾ.
ಗುಹೇಶ್ವರನ ಶರಣನ ಸಂಗಸುಖದ ಉರವಣೆಯ ಸೋಂಕು
ಲೋಕಕ್ಕೆ ವಿರೋಧ ! ॥ ೨೨೧॥

೫೩೨

ನೆಲವಿಲ್ಲದ ಭೂಮಿಯ ಮೇಲೊಂದು ಗಿಡು ಹುಟ್ಟಿತ್ತು !
ಸಿಡಿಲು ಬಣ್ಣದವೆಂಟು ಹೂವಾದವು ನೋಡಾ.

ಕೊಂಬಿನೊಳಗೆ ಫಲದೋರಿ ಬೇರಿನೊಳಗೆ ಹಣ್ಣಾಯಿತ್ತು !
ಆರೂ ಕಾಣದ ಠಾವಿನಲ್ಲಿ ತೊಟ್ಟು ಬಿಟ್ಟು ಬಿದ್ದ ಹಣ್ಣ
ಮೆದ್ದವನಲ್ಲದೆ ಶರಣನಲ್ಲ ಗುಹೇಶ್ವರಾ. ॥ ೨೨೨॥

೫೩೩

ಧ್ಯಾನ ಸೂತಕ, ಮೌನ ಸೂತಕ, ಜಪಸೂತಕ, ಅನುಷ್ಠಾನ ಸೂತಕ.
ಗುಹೇಶ್ವರನೆಂಬ ಲಿಂಗವನರಿದ ಬಳಿಕ ಸೂತಕ ಹಿಂಗಿತ್ತು,
ಯಥಾ ಸ್ವೇಚ್ಛೆ. ॥೨೨೩॥

೫೩೪

ಕೂರಹ ಮುಟ್ಟದೆ, ಕೂದಲು ಹರಿಯದೆ, ಬೋಳಾಗಬೇಕು.
ಕಾಯ ಬೋಳೋ ? ಕಪಾಲ ಬೋಳೊ ?
ಹುಟ್ಟುವುದು ಬೋಳೊ ? ಹುಟ್ಟದೆ ಹೋಹುದು ಬೋಳೊ ?
ಗುಹೇಶ್ವರಾ. ॥೨೨೪॥

೫೩೫

ನಿರಾಳಸ್ಥಾನದಲ್ಲಿ ಆಪ್ಯಾಯನವಿಲ್ಲದೆ ಹೋಯಿತ್ತದೇನೆಂಬೆನಯ್ಯಾ ?
ಹಲವು ನಾಮವಾದೆಯಲ್ಲಾ !
ಚಂದಚಂದದ ಚರಿತ್ರನಲ್ಲ – ನಿಲ್ಲು ಮಾಣು .
ನಿಮ್ಮಿಚ್ಛೆಯು ಪಡೆದರೆಮ್ಮವರು.
ಇಂತಹ ದೇವನು ಅಂತಹ ದೇವನು ಎಂಬ ನಾಮ ಉಳಿಸದು,
ಒಲ್ಲೆ ಕಾಣಾ ಗುಹೇಶ್ವರಾ. ॥೨೨೫॥

೫೩೬

ಆಗದಂತೆ ಆದೆನು, ಜಗದ ಆಗುವ ಕಂಡು ಬಲ್ಲೆನಾಗಿ ಒಲ್ಲೆನು.
ಜಗ ನಿಲ್ಲದು ಕಂಡಯ್ಯಾ.
ಮಾಡಿ ಮಾಡಿ ಕೆಡಿಸದಿರಾ, ನೀ ನಾಡಿಂಗೆ ಮರುಳಾಗದಿರಾ !
ಬೇಡು ಗುಹೇಶ್ವರಾ ನಿರಾಳವನೆನ್ನಲ್ಲಿ. ॥೨೨೬॥

೫೩೭

ಊರೊಳಗಣ ಕಿಚ್ಚು ಕಾನನದಲ್ಲಿ ಉರಿಯಿತ್ತು.
ಕಾನನದ ಕಿಚ್ಚು ಬಂದು ಊರೊಳಗೆ ಉರಿಯಿತ್ತು.
ಆರಿಸಿರೊ ಆರಿಸಿರೊ ನಾಲ್ಕು ದಿಕ್ಕಿನ ಬೇಗೆಯ.
ಆ ಭೂಭೂಕಾರವ ದೃಷ್ಟಿ ಮುಟ್ಟಿದಡೆ
ಅಟ್ಟೆ ಸಹಸ್ರವಾಡಿತ್ತು ! ಲೆಕ್ಕವಿಲ್ಲದ ಮರಣ ಮಡಿಯಿತ್ತು ಗುಹೇಶ್ವರಾ. ॥೨೨೭॥

೫೩೮

ಪರಿಣಾಮದೊಳಗೆ ಮನದ ಪರಿಣಾಮವೆ ಚೆಲುವು.
ಸಂಗದೊಳಗೆ ಶರಣರ ಸಂಗವೆ ಚೆಲವು.
ಕಾಯಗೊಂಡು ಹುಟ್ಟಿದ ಮೂಢರೆಲ್ಲರು
ಸಾಯದ ಸಂಚವನರಿವುದೆ ಚೆಲುವು—ಗುಹೇಶ್ವರಾ. ॥೨೨೮॥

೫೩೯

ಜಗತ್ಸೃಷ್ಟನಹ ಅಜನ ಕೊಂಬು ಮುರಿಯಿತ್ತು.
ಧರೆಯ ಚಂದ್ರಸೂರ್ಯರಿಬ್ಬರೂ ನೆಲಕ್ಕೆ ಬಿದ್ದರಲ್ಲಾ !
ಉದಯ ನಿಂದಡೆ ಅಸ್ತಮಾನವಹುದು.
ಊರು ಬೆಂದು ಉಲುಹಳಿದುದು. —ಇದೇನು ಸೋಜಿಗವೊ !
ದೇವ ಸತ್ತ, ದೇವಿ ಕೆಟ್ಟಳು, ಆನು ಬದುಕಿದೆನು ಗುಹೇಶ್ವರಾ. ॥೨೨೯॥

೫೪೦

ಅಂಗ ಲಿಂಗದಲ್ಲಿ ತರಹರವಾಗಿ, ಸಮತೆ ಶಾಂತಿಯಲ್ಲಿ ತರಹರವಾಗಿ,
ಮನ ಜ್ಞಾನದಲ್ಲಿ ತರಹರವಾಗಿ, ಭಾವ ನಿರ್ಭಾವದಲ್ಲಿ ತರಹರವಾಗಿ ಇರಬಲ್ಲಡೆ,
ಆತನೆ ಅಚ್ಚ ಶರಣನು ಕಾಣಾ ಗುಹೇಶ್ವರಾ. ॥೨೩೦॥

೫೪೧

ಉದಕದ ಕೈಕಾಲ ಮುರಿದು, ಅಗ್ನಿಯ ಕಿವಿಮೂಗನರಿದು,
ವಾಯುವ ತಲೆಯ ಕೊಯ್ದು, ಆಕಾಶವ ಶೂಲದಲಿಕ್ಕಿದ
ಬಲ್ಲಿದ ತಳವಾರನೀತನು !
ಅರಸು ಪ್ರಧಾನ ಮಂತ್ರಿ ಮೂವರ ಮುಂದುಗೆಡಿಸಿದ
ಬಲ್ಲಿದ ತಳವಾರನೀತನು !

ಒಂಬತ್ತು ಬಾಗಿಲ ಕದವನಿಕ್ಕಿ ಬಲಿದು ಬಿಯ್ಯಗವ ಹೂಡಿ
ನವಸಾಸಿರ ಮಂದಿಯ ಕೊಂದುಳಿದನು ಗುಹೇಶ್ವರ. ॥೩೩೧॥

೫೪೨

ಕಾಯದ ಕಳವಳವ ಗೆಲಿದಡೇನೊ, ಮಾಯದ ತಲೆಯನರಿಯದನ್ನಕ್ಕರ ?
ಮಾಯೆಯ ತಲೆಯನರಿದಡೇನೊ, ಜ್ಞಾನದ ನೆಲೆಯನರಿಯದನ್ನಕ್ಕರ ?
ಜ್ಞಾನದ ನೆಲೆಯನರಿದಡೇನೊ, ತಾನು ತಾನಾಗದನ್ನಕ್ಕರ ?
ತಾನು ತಾನಾದ ಶರಣರ ನಿಲವಿಂಗೆ
ಒಂದು ಧಾರೆ ಮೇರೆಯುಂಟೆ ಗುಹೇಶ್ವರಾ ? ॥೩೩೨॥

೫೪೩

ಆಡುತಾಡುತ ಬಂದ ಕೋಡಗ,
ಜಪವ ಮಾಡುವ ತಪಸಿಯ ನುಂಗಿತ್ತಲ್ಲಾ !
ಬೇಡ ಬೇಡೆಂದಿತ್ತು, ಮುಂದಣ ಕೇರಿಯ ಮೊಲನೊಂದು !
ಮುಂದಣ ಮೊಲನ ಹಿಂದಣ ಕೋಡಗವ
ಕಂಬಳಿ ನುಂಗಿತ್ತು ಗುಹೇಶ್ವರಾ. ॥೩೩೩॥

೫೪೪

ಧರೆಯೂ ಬ್ರಹ್ಮಾಂಡವೂ ಚಂದ್ರಸೂರ್ಯ ತಾರಾಮಂಡಲವೂ
ಇಲ್ಲಿಂದತ್ತಲೆ ನೋಡಾ.
ನರನಲ್ಲ ಸುರನಲ್ಲ ಭ್ರಾಂತನಲ್ಲ ಶರಣನು,
ಲಿಂಗಸನ್ನಹಿತ ಅಪಾರಮಹಿಮನು.
ಸುರಾಸುರರೆಲ್ಲರು ನಿಮ್ಮ ವರದಲ್ಲಿ ಸಿಲುಕಿದರು !
ಸರಸದೊಳಗಲ್ಲ ಹೊರಗಲ್ಲ ಕೇಳು ಭಾವ ಗುಹೇಶ್ವರ. ॥೩೩೪॥

೫೪೫

ಕಿಚ್ಚಿನ ದೇವನು, ಕೆಂಡದ ದೇವನು,
ಮಾರಿಯ ದೇವನು, ಮಸಣದ ದೇವನು,
ತಿರುಕ ಗೊರವನೆಂದು ಅಲ್ಲಲ್ಲಿ ಒಂದೊಂದನಾಡುತ್ತಿಪ್ಪರಯ್ಯಾ.
ನಾ ನಿಮ್ಮ ಪೂಜಿಸಿ ನಷ್ಟಸಂತಾನವಾಗಿ,
ಬಟ್ಟಬಯಲಲ್ಲಿ ಬಿದ್ದು ಕೆಟ್ಟೆನು ಗುಹೇಶ್ವರಾ. ॥೩೩೫॥

೫೪೬

ಕಾಮನ ಕೈ ಮುರಿದಡೆ ಮೋಹ ಮುಂದುಗೆಟ್ಟಿತ್ತು.
ಆಮಿಷ ತಾಮಸಧಾರಿಗಳೆಲ್ಲ ಎಳತಟವಾದರು.
ಅಕ್ಕಟಾ, ಅಯ್ಯಲಾ, ನಿಮ್ಮ ಕಂಡವರಾರೊ?
ಆಳವಿಲ್ಲದ ಸ್ನೇಹಕ್ಕೆ ಮರಣವೆ ಮಹಾನವಮಿ.
ಗುಹೇಶ್ವರನನರಿಯದೆ ರಣಭೂಮಿಗಳುಲಿದವು ! ॥೧೩೬॥

೫೪೭

ಕಲ್ಯಾಣವರಿಯೆ ಕಟಕವರಿಯೆ ಬೇಂಟೆಯನಾಡುತ್ತಿದ್ದೆ.
ಎನ್ನ ಕೈ ನೋಡಿ ಭೋ ಕಲಿ ವೀರ ಸುಭಟರು.
ಎನ್ನ ಕೈ ನೋಡಿ ಭೋ ಅರುಹಿರಿಯರು.
ಕಾದಿ ಗೆಲಿದು ಗುಹೇಶ್ವರಲಿಂಗದಲ್ಲಿಗೆ ತಲೆವರಿಗೆಯನಿಕ್ಕಿ ಬಂದೆ,
ಎನ್ನ ಕೈ ನೋಡಿ ಭೋ. ॥೧೩೭॥

೫೪೮

ಆಸುರವಾದುದು ಬೀಸರವಾಯಿತ್ತು.
ಬಲ್ಲೆನೊಲ್ಲೆ ನೀ ಕೊಡುವ ವರವನು.
ನಾ ಬೇಡಿತ್ತು ನಿನ್ನ ಮುಖದಲಿಲ್ಲ ಗುಹೇಶ್ವರಾ. ॥೧೩೮॥

೫೪೯

ಅತಿರಥ ಸಮರಥರೆನಿಪ ಹಿರಿಯರು,
ಮತಿಗೆಟ್ಟು ಮರುಳಾದರಲ್ಲಾ !
ದೇವಸತ್ತ ಬ್ರಹ್ಮ ಹೊತ್ತ, ವಿಷ್ಣು ಕಿಚ್ಚ ಹಿಡಿದ.
ಗಂಗೆಗೌರಿಯರಿಬ್ಬರು ಬರು ಮುಂಡೆಯರಾದರು.
ಇದ ಕಂಡು ಬೆರಗಾದೆ ಗುಹೇಶ್ವರಾ. ॥೧೩೯॥

೫೫೦

ಹಿಂದಣ ಕವಿಗಳೆನ್ನ ತೊತ್ತಿನ ಮಕ್ಕಳು
ಮುಂದಣ ಕವಿಗಳೆನ್ನ ಕರುಣದ ಕಂದಗಳು.
ಆಕಾಶದ ಕವಿಗಳೆನ್ನ ತೊಟ್ಟಿಲ ಕೂಸು.
ಹರಿಬ್ರಹ್ಮರೆನ್ನ ಕಕ್ಷಕುಳ.
ನೀ ಮಾವ ನಾನಳಿಯ ಗುಹೇಶ್ವರಾ. ॥೧೪೦॥

೫೫೧

ದೇವಲೋಕದ ದೇವಗಣಂಗಳೆಲ್ಲ ಎನ್ನ ಹೊರಗೆಂಬರು;
ಅದು ದಿಟವೆ.
ಸತ್ಯ ಸಾತ್ವಿಕ ಸದ್ಭಕ್ತರು ಎನ್ನ ಹೊರಗೆಂಬರು;
ಅದು ದಿಟವೆ.
ಹದಿನಾಲ್ಕು ಭವನದೊಳಗೆ ಅವರು ತಾವಿರಲಿ,
ನಾ ನಿಮ್ಮೊಳಗು ಗುಹೇಶ್ವರಾ. ॥೪೨೧॥

೫೫೨

ಪಂಚಮಹಾಪಾತಕವಾವುದೆಂದರಿಯರು –
ಭವಿಯ ತಂದು ಭಕ್ತನ ಮಾಡೂದು ಪ್ರಥಮ ಪಾತಕ.
ಭಕ್ತರಿಗೆ ಶರಣೆಂಬುದು ದ್ವಿತೀಯ ಪಾತಕ, ಗುರುವೆಂಬುದು ತೃತೀಯ ಪಾತಕ.
ಗುರು ಲಿಂಗ ಜಂಗಮದ ಪ್ರಸಾದವ ಕೊಂಡಡೆ ನಾಲ್ಕನೆಯ ಪಾತಕ.
ಗುಹೇಶ್ವರಲಿಂಗದಲ್ಲಿ ಹಿರಿದು ಭಕ್ತಿಯ ಮಾಡೂದು ಪಂಚಮ ಪಾತಕ ! ॥೨೪೨॥

೫೫೩

ಆಗಮ್ಯ ಅಗೋಚರನೆನಿಸಿಕೊಂಡು, ಅವರಿವರ ಕೈಗೆ ಎಂತು ಬಂದೆ ?
ಉಗುರುಗಳೆಲ್ಲ ಸುತ್ತಿದವೆ? ಅಗ್ಘವಣಿ ಪತ್ರೆ ಅರತವೆ ಅಯ್ಯಾ ?
ಎನ್ನ ಕರಸ್ಥಲದೊಳಗಿರ್ದು ಎನ್ನೊಡನೆ ನುಡಿಯೆ,
ನಿನ್ನ ಹಲ್ಲ ಕಳೆದಡೆ ಒಡೆಯರುಂಟೆ ಗುಹೇಶ್ವರಾ? ॥೨೪೩॥

೫೫೪

ಶ್ವೇತ ಪೀತ ಕಪೋತ ಹರಿತ ಕೃಷ್ಣ ಮಾಂಜಿಷ್ಟವೆಂಬ
ಷಡುವರ್ಣವೆಂದೆನ್ನ.
ಉಂಡು ಉಪವಾಸಿ ಬಳಸಿ ಬ್ರಹ್ಮಚಾರಿಯೆಂದೆನ್ನ.
ಲಿಂಗವಿಂತುಟೆನ್ನ, ಲಿಂಗೈಕ್ಯವ ನುಡಿಯ.
ಅಭಂಗನ ನಿಲವ ಭಂಗಿತರೆತ್ತ ಬಲ್ಲರು ಗುಹೇಶ್ವರಾ. ॥೨೪೪॥

೫೫೫

ಆಡಾಡ ಬಂದ ಕೋಡಗ ಹಂದರವನೇರಿತ್ತಲ್ಲಾ !
ನೋಡಬಂದವರ ಕಣ್ಣೆಲ್ಲಾ ಒಡೆದವು.
ಬೆಣ್ಣೆಯ ತಿಂದವರ ಹಲ್ಲೆಲ್ಲಾ ಹೋದವು !
ಇದೇನು ಸೋಜಿಗ ಹೇಳಾ ಗುಹೇಶ್ವರಾ? ॥೨೪೫॥

೫೫೬

ಕೆಂಡದ ಮಳೆ ಕರೆವಲ್ಲಿ ಉದಕವಾಗಿರಬೇಕು.
ಜಲಪ್ರಳಯವಾದಲ್ಲಿ ವಾಯುವಿನಂತಿರಬೇಕು.
ಮಹಾಪ್ರಳಯವಾದಲ್ಲಿ ಆಕಾಶದಂತಿರಬೇಕು.
ಜಗತ್‌ಪ್ರಳಯವಾದಲ್ಲಿ ತನ್ನ ತಾ ಬಿಡಬೇಕು,
ಗುಹೇಶ್ವರನೆಂಬ ಲಿಂಗ ತಾನಾಗಿರಬೇಕು. ॥೨೪೬॥

೫೫೭

ಅರೆಯ ಮೇಲಣ ಹುಲ್ಲೆಗೆ ಕೆಂಗರಿಯ ಬಾಣವ ತೊಟ್ಟವನೆ (ತೊಟ್ಟಡೆ ?)
ತಪ್ಪದೆ ತಾಗಿತ್ತಲ್ಲಾ ! ಅದು ಒಂದೆ ಬಾಣದಲ್ಲಿ ಅಳಿಯಿತ್ತಲ್ಲಾ !
ನಾರಿ ಹರಿಯಿತ್ತು, ಬಿಲ್ಲು ಮುರಿಯಿತ್ತು.
ಹುಲ್ಲೆ ಎತ್ತ ಹೋಯಿತ್ತು ಗುಹೇಶ್ವರಾ? ॥೨೪೭॥

೫೫೮

ನಾ ದೇವನಲ್ಲದೆ ನೀ ದೇವನೆ ?
ನೀ ದೇವನಾದಡೆ ಎನ್ನನೇಕೆ ಸಲಹೆ ?
ಆರೈದು, ಒಂದು ಕುಡಿತೆ ಉದಕವನೆರೆವೆ,
ಹಸಿದಾಗ ಒಂದು ತುತ್ತು ಓಗರವನಿಕ್ಕುವೆ. –
ನಾ ದೇವ ಕಾಣಾ ಗುಹೇಶ್ವರಾ ! ॥೨೪೮॥

೫೫೯

ಒಕ್ಕು ಮಿಕ್ಕುದ ಕೊಂಬ ನಿಶ್ಚಲಪ್ರಸಾದಿ ನೀ ಕೇಳಾ.
ಒಕ್ಕುದಾವುದು? ಮಿಕ್ಕುದಾವುದು? ಬಲ್ಲಡೆ ನೀ ಹೇಳಾ.
ಒಕ್ಕು ಹೋಹುದು ಕಾಯ, ಮಿಕ್ಕು ಹೋಹುದು ಪ್ರಾಣ.
ಇದು ತಕ್ಕುದೆಂದರಿದು, ಕೊಳಬಲ್ಲಡೆ
ಸಿಕ್ಕುವನು ನಮ್ಮ ಗುಹೇಶ್ವರನು. ॥೨೪೯॥

೫೬೦

ಕಲ್ಲ ಹೋರಿನೊಳಗೊಂದು ಕಾರ್ಯವ ಕಾಬಡೆ,
ಕಲ್ಲ ಬೆದಕದೆ ಕಪ್ಪೆಯ ಸೋಂಕದೆ
ಅಲ್ಲಿಯ ಉದಕವ ಕುಡಿಯ ಬಲ್ಲಡೆ– ಅದು ಯೋಗ.
ಬಲ್ಲಡೆ ನಿಮ್ಮಲ್ಲಿ ನೀವೆ ತಿಳಿದು ನೋಡಿರೆ.
ಅರಿವ ಯೋಗಕ್ಕಿದು ಚಿಹ್ನವಯ್ಯಾ:
ಕಲ್ಲು ಕಪ್ಪೆಯೊಳಗಣ ಹುಲ್ಲುರಿಯದೆ ಅಟ್ಟುಂಬಂತೆ ಗುಹೇಶ್ವರಾ. ||೨೫೦||

೫೬೧

ನೀರಿಲ್ಲದ ನೆರಳಿಲ್ಲದ ಬೇರಿಲ್ಲದ ಗಿಡುವ
ತಲೆಯಿಲ್ಲದ ಮೃಗ ಬಂದು ಮೇಯಿತ್ತು.
ಕಣ್ಣಿಲ್ಲದ ಕುರುಡನು ಕಂಡನಾ ಮೃಗವ.
ಕೈಯಿಲ್ಲದ ವ್ಯಾಧನು ಎಚ್ಚನಾ ಮೃಗವ.
ಕಿಚ್ಚಿಲ್ಲದ ನಾಡಿಗೊಯ್ದು ಸುಟ್ಟು ಬಾಣಸವ ಮಾಡೆ
ಲಿಂಗಕ್ಕರ್ಪಿತವಾಯಿತ್ತು ಗುಹೇಶ್ವರಾ ! ||೨೫೦||

೫೬೨

ನೀ ನಾನೆಂಬ ಭಾವವಾರಿಂದಾಯಿತ್ತು ಹೇಳಾ?
ನೀನೆಂಬುದು ಅಜ್ಞಾನ, ನಾನೆಂಬುದು ಮಾಯಾಧೀನ.
ನೀನೆನ್ನದೆ ನಾನೆನ್ನದೆ ಇಪ್ಪ ಸುಖವ
ಭಿನ್ನವಿಲ್ಲದೆ ಅರಿಯಬಲ್ಲಡೆ;
ಆ ಸುಖ ನಿಮಗರ್ಪಿತ ಕಾಣಾ ಗುಹೇಶ್ವರಾ. ||೨೫೨||

೫೬೩

ಇಪ್ಪತ್ತೈದು ತತ್ವದ ಹತ್ತೆಂಬ ದ್ವಾರದಲ್ಲಿ ಬಳಲುವ
ವ್ಯರ್ಥಗೇಡಿ ಮನವ ನಾನೇನೆಂಬೆನಯ್ಯಾ?
ತನ್ನ ತಾ ತಿಳಿಯಲು ತನಗೆ ತಾನನ್ಯವಿಲ್ಲ ಮರುಳೆ
ಮುತ್ತಯ್ಯನ ಬೆಣ್ಣೆಯ, ಶಿಶು ನುಂಗಿತ್ತು.
ಮತ್ತೆ ಶಿಶುವಿನ ಸುಖವನೇನೆಂಬೆ ಗುಹೇಶ್ವರಾ? ||೨೫೩||

೫೬೪

ಶಬ್ದವೆಂಬೆನೆ? ಶ್ರೋತ್ರದೆಂಜಲು. ಸ್ಪರ್ಶವೆಂಬೆನೆ ತ್ವಕ್ಕಿನೆಂಜಲು.
ರೂಪೆಂಬೆನೆ ? ನೇತ್ರದೆಂಜಲು. ರುಚಿಯೆಂಬೆನೆ? ಜಿಹ್ವೆಯೆಂಜಲು.

ಪರಿಮಳವೆಂಬೆನೆ ? ಘ್ರಾಣದೆಂಜಲು. ನಾನೆಂಬೆನೆ? ಅರಿವಿನೆಂಜಲು.
ಎಂಜಲೆಂಬ ಭಿನ್ನವಳಿದ, ಬೆಳಗಿನೊಳಗಣ ಬೆಳಗು
ಗುಹೇಶ್ವರನೆಂಬ ಲಿಂಗವು. ॥೨೫೪॥

೫೬೫

ಹಸಿವರತಲ್ಲದೆ ಪ್ರಸಾದಿಯಲ್ಲ.
ತೃಷೆಯರತಲ್ಲದೆ ಪಾದೋದಕಿಯಲ್ಲ.
ನಿದ್ರೆಯರತಲ್ಲದೆ ಭವವಿರಹಿತನಲ್ಲ.
ಅನಲ – ಪವನವರತಲ್ಲದೆ ಪ್ರಾಣಲಿಂಗಿಯಲ್ಲ. –
ಇದು ಕಾರಣ, ಗುಹೇಶ್ವರಲಿಂಗವು ಎಲ್ಲರಿಗೆಲ್ಲಿಯದೊ? ॥೨೫೫॥

೫೬೬

ಪಿಂಡಬ್ರಹ್ಮಾಂಡದೊಳಗೆ ತಂಡ ತಂಡದ ಲೋಕ.
ಗಂಡ ಗಂಡರನಿರಿಸಿ, ಬಡವರೊಡೆಯರ ನುಂಗಿ,
ನಾಡೊಳಗೆ ನಿಡು ನಡೆದು, ಮಡುವನೆಲ್ಲವ ತೊಡೆದು
ನಡುರಂಗದಲ್ಲಿ ಕೊಡನೊಡೆಯಲೀಯದೆ;
ಮಡದಿಯೊಡಗೂಡಿ, ಗಗನವನಡಿಗೆಯ ಮಾಡಿ
ಉಂಡು ಸುಖಿಯಾದೆ ಗುಹೇಶ್ವರಾ. ॥೨೫೬॥

೫೬೭

ಪರಮಸುಖದ ಪರಿಣಾಮದ ಇರವ ಬಲ್ಲವರಾರೊ?
ಅದು ದೊರಕೊಳ್ಳದು ನೋಡಾ !
ತನತನಗೆ ತನ್ನ ಇರವ ಲಿಂಗದಲ್ಲಿರಿಸಿ, ಪರವ ಮನದಲ್ಲಿ ಹಿಡಿದು
ಇಹ ಪರವೆಂಬುದೊಂದು ಭ್ರಾಂತಳಿದು,
ನಿರತಿಶಯ ಸುಖದೊಳಗೆ ನಿಜವಾಗಿರಬಲ್ಲ
ನಿಮ್ಮ ಶರಣನನುಪಮಪ್ರಸಾದಿ ಗುಹೇಶ್ವರಾ. ॥೨೫೭॥

೫೬೮

ಗಂಗಾದೇವಿಯ ಹುಳಿಯ ಕಾಸಿ, ಗೌರಿದೇವಿಯ ಕೂಳನಟ್ಟು,
ಭಕ್ತನ ಬಾಡನಟ್ಟು, ದೇವನ ಸಾಸವೆಗಲಸಿ,
ಬ್ರಹ್ಮನಡ್ಡಣಿಗೆ, ವಿಷ್ಣು ಪರಿಯಾಣ, ರುದ್ರನೋಗರ,

ಈಶ್ವರ ಮೇಲೋಗರ. ಸದಾಶಿವ ತುಪ್ಪ:
ಉಣಲಿಕ್ಕಿ ಕೈಕಾಲು ಮುರಿಯಿತ್ತು. ಗುಹೇಶ್ವರಾ. ॥೨೫೮॥

೫೭೯

ಉಂಡೆನುಟ್ಟೆನೆಂಬ ಸಂದೇಹ ನಿನಗೇಕಯ್ಯಾ?
ಉಂಬುದೆ ಅಗ್ನಿ? ಉಡುವುದೆ ಪೃಥ್ವಿ?
ನೀನೆಂದು ಉಂಡೆ? ನಾನೆಂದು ಕಂಡೆ?
ಉಣ್ಣದೆ ಉಡದೆ ಹೊಗೆಯ ಕೈಯಲ್ಲಿ ಸತ್ತೆನೆಂಬ ಅಂಜಿಕೆ
ನಿನಗೆ ಬೇಡ. ಅಂಜದಿರು.–
ಗುಹೇಶ್ವರಾ ನಿನಗಾವ ಸಾಚಿಕೆಯೂ ಇಲ್ಲ. ॥೨೫೯॥

೫೮೦

ಮೇರುಮಂದಿರದಲ್ಲಿ ಈರ್ಬೈದರತಲೆ.
ಧಾರುಣಿಯ ಜನರೆಲ್ಲ ಬಣ್ಣಿಸುತ್ತಿಪ್ಪರು.
ಜ್ಞಾನಾಮೃತರಸದಲ್ಲಿ ಓಗರವ ಮಾಡಿ ಆರೋಗಣೆಯ ಮಾಡಿದೆನು.
ವಿಷಮಾಕ್ಷ ಹರ ಭಸ್ಮವಿಭೂಷಣ ಶಶಿಧರ
ಶರಣು ಶರಣೆನುತಿದ್ದೆನು.
ಇಂದ್ರಾಗ್ನಿಯ ಪುರಪಟ್ಟಣದಲ್ಲಿ ಚಂದ್ರಾಹಾರವ (ಚಂದ್ರಹಾರ?) ಬೇಡಿದಡೆ
ಖಂಡಕಪಾಲದಲ್ಲಿ ಉಂಡ ತೃಪ್ತಿ.
ಅಖಂಡ ನಿರಾಳ ಗುಹೇಶ್ವರ. ॥೨೬೦॥

೫೮೧

ಶಿಷ್ಯನ ಮುಖದಿಂದಾದ ಗುರುವಿಂಗೆ ಶಿಷ್ಯನ ಪ್ರಸಾದ.
[ಶಿಷ್ಯನ ಪ್ರಸಾದ ಗುರುವಿಂಗಲ್ಲದೆ] ಗುರುವಿನ ಪ್ರಸಾದ ಶಿಷ್ಯಂಗಿಲ್ಲ !
ಇದು ಕಾರಣ.– ಗುರುವೆ ಓಗರ. ಓಗರವೆ ಅರ್ಪಿತ.
ಪ್ರಸಾದ ಪ್ರಸಾದವೆಂದು ಉಂಡುಂಡು ಸವೆದರಲ್ಲಾ !
ಸುಡು ಸುಡು. ಶಬ್ದ ಸೂತಕರ ಕೈಯಲ್ಲಿ,
ಸ್ಥಾವರ ವಿಧಿವಶವಾಯಿತ್ತು ಗುಹೇಶ್ವರಾ. ॥೨೬೧॥

೫೮೨

ಒಳಗೆ ನೋಡಿಹೆನೆಂದಡೆ ಒಳಗೆ ನಿರಾಳ.
ಹೊರಗೆ ನೋಡಿಹೆನೆಂದಡೆ ಹೊರಗೆ ನಿರಾಳ.

ಹೊಲದಲ್ಲಿ ಆವಿಲ್ಲ ಮನೆಯಲ್ಲಿ ಕರುವಿಲ್ಲ.
ನೆಲಹಿನ ಮೇಲಣ ಬೆಣ್ಣೆ – ಇದು ದಿಟವೊ?
ನಾರಿವಾಳದ ಕಾಯೊಳಗಣ ತಿರುಳ
ಒಡೆಯದೆ ಮೆಲಬಲ್ಲಡೆ ಬೆಡಗು – ಗುಹೇಶ್ವರಾ. ॥೨೬೨॥

೫೭೩

ಹಸಿವಿಲ್ಲದೆ ಉಣಬಲ್ಲಡೆ. ಉಪಾಧಿಯಿಲ್ಲದೆ ಬೇಡಬಲ್ಲಡೆ.
ಅದು ವರ್ಮ. ಅದು ಸಂಬಂಧ.
ಗಮನವಿಲ್ಲದೆ ಸುಳಿಯಬಲ್ಲಡೆ. ನಿರ್ಗಮನಿಯಾಗಿ ನಿಲಬಲ್ಲಡೆ
ಅದು ವರ್ಮ. ಅದು ಸಂಬಂಧ.
ಅವರ ನಡೆ ಪಾವನ. ಅವರ ನುಡಿ ತತ್ವ,
ಅವರು(ರ?) ಜಗದಾರಾಧ್ಯರೆಂಬೆ ಗುಹೇಶ್ವರಾ. ॥೨೬೩॥

೫೭೪

ಉಂಡೆಹೆನೆಂದಡೆ ಹಸಿವಿಲ್ಲ, ಕಂಡೆಹೆನೆಂದಡೆ ಪ್ರತಿಯಿಲ್ಲ.
ನೋಡಿಹೆನೆಂದಡೆ – ಉದಕದೊಳಗಣ ಜ್ಯೋತಿಯಂತಾದವು (ಜ್ಯೋತಿಯಂತೆ ?)
ಗುಹೇಶ್ವರಾ. ನಿಮ್ಮ ನಾಮವ ಹಿಡಿದು ಬಿಟ್ಟಡೆ ಭಂಗವಯ್ಯಾ. ॥೨೬೪॥

೫೭೫

ಉಂಡಡೇನೊ ? ಉಣದೆ ಇರ್ದಡೇನೊ?
ಸೋಂಕಿತವೇನೊ ? ಅಸೋಂಕಿತವೇನೊ?
ಹುಟ್ಟೂದಿಲ್ಲಾಗಿ ಹೊಂದೂದಿಲ್ಲ
ಸತ್ತು ಬದುಕಿ ನಿಶ್ಚಿಂತವಾಯಿತ್ತು ಗುಹೇಶ್ವರಾ. ॥೨೬೫॥

೫೭೬

ಅಂಬರವಿಲ್ಲದ ಮೇರು. ಅಂಬುಧಿಯಿಲ್ಲದ ಗುಂಪ
ತಂದವರಿಲ್ಲದೆ ಬಂದಿತ್ತು. ನಿಜವನೊಳಕೊಂಡಿತ್ತು
ಸಾಧನವಿಲ್ಲದ ಓಗರವ ಭಾಜನವಿಲ್ಲದೆ ಗಡಣಿಸಿ
ಭೋಜನವಿಲ್ಲದೆ ತೃಪ್ತಿಯಾಯಿತ್ತು ನೋಡಾ.
ಕ್ರಿಯಾವಿರಹಿತಯೋಗ ಫಲದಾಯಕ ಹೀನಭಕ್ತಿ,
ಆಯತ ಸ್ವಾಯತವರಿಯದೆ ಹೋಯಿತ್ತು ಗುಹೇಶ್ವರಾ. ॥೨೬೬॥

೫೭೭

ಬೆಲ್ಲದ ಪುತ್ಥಳಿಯ ಕೈಯಲ್ಲಿ ಹಿಡಿದು
ಎಲ್ಲಿ ಚುಂಬಿಸಿದಡೂ ಇನಿದಹುದು.
ಒಳ್ಳಿಹ ಬೇವಿನ ಹಣ್ಣ ಮೆಲ್ಲನೆ ಚುಂಬಿಸಿದಡೆ ಇನಿದಹುದೆ?
ಎಲ್ಲ ವಿದ್ಯೆಯನೂ ಬಲ್ಲೆವೆಂದೆಂಬರು,
ಅವರು ಅ(ಸ?)ಲ್ಲದೆ ಹೋದರಯ್ಯಾ ಗುಹೇಶ್ವರಾ. ॥೨೭೭॥

೫೭೮

ನಿರವಯ ನಿರ್ಗುಣ ನಿಃಶೂನ್ಯಲಿಂಗಕ್ಕೆ
ಶರಣರು ತಮ್ಮ ತಮ್ಮ ತನುಗುಣಾದಿಗಳ
ಅರ್ಪಿಸಿಹೆನೆಂಬುದೆ ಮಹಾಪಾಪ!
ಅವು ತಮ್ಮ ತನುವಿನಲ್ಲಿಪ್ಪುದೆ ಭಂಗ. ಅದೇ ಕರ್ಮ.
ಈ ಉಭಯ ನಾಸ್ತಿಯಾಗದ ಸುಳುಹು
ಮುಂದೆ ಕಾಡಿಹುದಯ್ಯಾ ಗುಹೇಶ್ವರಾ. ॥೨೭೮॥

೫೭೯

ನೋಡಲಿಲ್ಲದ ಶೃಂಗಾರ. ಮಾತಾಡಲಿಲ್ಲದ ಶಬ್ದ
ಬೇಡಲಿಲ್ಲದ ವರ – ನೋಡಿರೆ ನಿರಾಳವ !
ಬಾಡಲಿಲ್ಲದ ಸಸಿಯ ಬೆಳಸು
ಕೂಡದೆ ಕೂಡಿತ್ತೊಂದು ಸುಖವ ಕಂಡೆ ನಾನು.
ಇಲ್ಲದ ಉಪಕಾರ ಮೆಲ್ಲದ ಸವಿಯಿಂದ
ಸುಖಿಯಾದೆ ಗುಹೇಶ್ವರಾ. ॥೨೭೯॥

೫೮೦

ನಾನು ಸಜ್ಜೀವವೊ. ನೀನು ಸಜ್ಜೀವವೊ ?
ನಿನಗೆಯೂ ಎನಗೆಯೂ ಸಂಬಂಧವಯ್ಯಾ,
ನಿನ್ನನೆಂತು ಪ್ರಾಣಲಿಂಗವೆಂದು ಪೂಜಿಸುವೆನಯ್ಯಾ ?
ಎನ್ನ ಪ್ರಸಾದವು ನಿನಗೆ ನಿನ್ನ ಪ್ರಸಾದವು ಎನಗೆ.
ಎನಗೆಯೂ ನಿನಗೆಯೂ ಏಕಪ್ರಸಾದ ಕಾಣಾ ಗುಹೇಶ್ವರಾ. ॥೨೮೦॥

೫೮೧

ತಲೆಯ ಮೇಲೆ ತಲೆಯಿದ್ದಿತ್ತಲ್ಲಾ !
ಆ ತಲೆಯಾತಲೆ ನುಂಗಿತ್ತಲ್ಲಾ !

ಸತ್ತು ಹಾಲ ಸವಿಯು ಬಲ್ಲಡೆ,
ರಥದ ಕೀಲ ಬಲ್ಲಡೆ– ಅದು ಯೋಗ !
ಶಿಶು ಕಂಡ ಕನಸಿನಲುಳ್ಳ ತೃಪ್ತಿ ನಿನ್ನಲ್ಲಿ ಉಂಟೆ ಗುಹೇಶ್ವರಾ? ॥೨೭೧॥

೫೮೨

ಅರಿವಿನೊಳಗೊಂದು ಮರವೆಯದೆ. ಮರವೆಯೊಳಗೊಂದು ಅರಿವದೆ.
ಅರಿವು ಮರವೆಯೆಂಬೆರಡೂ ಅಳಿದಡೆ ನಿರ್ಣಯವದೆ (ನಿರ್ವಯಲಿದೆ?).
ತಾನೆಂಬಲ್ಲಿ ನಿಷ್ಪತ್ತಿಯಿದೆ– ಇದೇನು ಹೇಳಾ ಗುಹೇಶ್ವರಾ? ॥೨೭೨॥

೫೮೩

ಜೂಜಿನ ವೇಧೆಯುಂಟು ಜಾಗರದ ಬಲವಿಲ್ಲ;
ಆಗಲೂ ಗೆಲಲುಂಟೆ ಪ್ರಾಣಪದತನಕ?
ರತುನದ ಸರ ಹರಿದು ಸೂಸಿ ಬಿದ್ದಡೆ
ಮಾಣಿಕವ ಬೆಲೆಯಿಟ್ಟು ಬಿಲಿತವರಿಲ್ಲ.
ಸರ್ಪಿಣಿ ಸರ್ಪನ ನುಂಗಿ [ದೀಪವ ನುಂಗಿತ್ತು]
ಇದು, ಯೋಗದ ದೃಷ್ಟಾಂತ ಗುಹೇಶ್ವರಾ. ॥೨೭೩॥

೫೮೪

ಭೂತಳದ ಮತಿವಂತರು ಆತ್ಮನ ಸ್ಥಲವಿಡಲು
ಮಾತು ಮಾಣಿಕವ ನುಂಗಿ; ಜಾತಿ ಧರ್ಮವನುಡುಗಿ.
ವ್ರತದ ಭ್ರಮೆಗಳ ಸುಟ್ಟು, ಚಿತ್ತ ಭಸ್ಮವ ಧರಿಸಿ
ಅಣಿಮಾದಿ ಗುಣಂಗಳ ಗತಿಯ ಪಥವನೆ ಮೀರಿ.
ಭ್ರಾಂತಳಿದು ಜ್ಯೋತಿ ಬೆಳಗುತ್ತಿದೆ ಗುಹೇಶ್ವರಾ. ॥೨೭೪॥

೫೮೫

ನೋಡೂದ ನೋಡಲರಿಯದೆ. ಕೆಟ್ಟಿತ್ತೀ ಲೋಕವೆಲ್ಲ.
ನೋಡೂದ ನೋಡಬಲ್ಲಡೆ ಕೂಡಲಿಲ್ಲ ಅಗಲಲಿಲ್ಲ.
ನೋಟದ ಕೂಟದ ಅಗಲದ ಸುಖವನು
ಗುಹೇಶ್ವರಾ ನಿಮ್ಮ ಶರಣ ಬಲ್ಲ ! ॥೨೭೫॥

೫೮೭

ಭುವನ ಹದಿನಾಲ್ಕರ ಭವನದ ಕೀಲನೆ ಕಳೆದು
ಉರವಣಿಸುವ ಪವನಂಗಳ ತರಹರಿಸಿದಡೆ-ಅದು ಯೋಗ !
ಚತುರಸದೊಳಗಣ ನಿಲವ ಕಾಣಬೇಕು.
ವಜ್ರ ನೀಲದ ಹೊದಿಕೆಯಲ್ಲಿರ್ದ ಭುವನಂಗಳ ಹೊದ್ದಿ
ಮಾಣಿಕವ ನುಂಗಿ ಉಗುಳದು-ಗುಹೇಶ್ವರಾ. ॥ ೨೭೬ ॥

೫೮೭

ತಾನಿರ್ದು ತನ್ನನರಿಯದೆ ಇನ್ನೆಂದಿಗೆ ಶರಣನಪ್ಪನಯ್ಯಾ ?
ಪವನಸ್ಥಾನವನರಿದ ಬಳಿಕ, ಬಂದು ಬಂದು ಸುಳಿಯಲಿಲ್ಲ.
ಇದರಂತುವನಾರು ಬಲ್ಲರು ಗುಹೇಶ್ವರಾ—ನಿಮ್ಮ ಶರಣರಲ್ಲದೆ ? ॥ ೨೭೭ ॥

೫೮೮

ಆಕಾಶವ ನುಂಗಿದ ಸರ್ಪನ ಫಣೆಯ ಮಣಿಯೊಳಗಣ ಕಪ್ಪೆ.
ವಾಯುವನಲನ ಸಂಚವ ನುಂಗಿತ್ತದೇನೊ ?
ರೂಹಿಲ್ಲದ ತಲೆಗೆ. ಮೊಲೆ ಮೂರಾಯಿತ್ತ ಕಂಡೆ !
ಉಂಡಾಡುವ ಶಿಶುವಿನ ಕೈಯಲ್ಲಿ ಮಾಣಿಕದಾರತಿಯ ಕಂಡೆ !
ಕಾಯವಿಲ್ಲದ ಹೆಣನ ವಾಯುವಿಲ್ಲದೆ ಜವನೆಳೆದೊಯ್ದನೆಂಬ
ವಾಯಕ್ಕೆ ವಾಯವನೇನೆಂಬೆ ಗುಹೇಶ್ವರಾ ! ॥ ೨೭೮ ॥

೫೮೯

ಶಿವಶಕ್ತಿ ಸಂಪುಟವೆಂಬುದೆಂತು ಹೇಳಿರಣ್ಣಾ;
ಶಿವನೆ ಚೈತನ್ಯಾತ್ಮಕನು, ಶಕ್ತಿಯೆ ಚಿತ್ತು.
ಇಂತು—ಚೈತನ್ಯಾತ್ಮಕನೆ ಚಿತ್‌ಸ್ವರೂಪನೆಂದರಿಯ ಬಲ್ಲಡೆ
ಆತನೆ ಶರಣ ಗುಹೇಶ್ವರಾ. ॥ ೨೭೯ ॥

೫೯೦

ಆಕಾಶದ ಬೀಜ ಅಗ್ನಿಯಲೊದಗಿ, ಶಾಖವಿಲ್ಲದೆ ಮೊಳೆತು ಪಲ್ಲವಿಸಿತ್ತು.
ಅರಿದೆಹೆನೆಂಬವನನಾರಡಿಗೊಂಡಿತ್ತು.
ಈ ನಿರ್ಣಯವನರಿಯದ ಮಾನವಾ,
ಗುಹೇಶ್ವರನೆಂಬುದು ಬಯಲ ವಿಕಾರ ! ॥೨೮೦॥

೫೯೧

ಹರಿದರಸಿಹೆನೆಂದಡೆ ಮನದ ವಿಕಾರ.
ಸುಳಿದರಸಿಹೆನೆಂದಡೆ ಪವನ ವಿಕಾರ.
ನಿಂದರಸಿಹೆನೆಂದಡೆ ಕಾಯವಿಕಾರ.
ಒಳಗರಸಿಹೆನೆಂದಡೆ ಜ್ಞಾನವಿಕಾರ.
ಅರಸಲಿಲ್ಲದೆ ಬೆರಸಬಲ್ಲಡೆ, ಆತನೆ ಶರಣ ಗುಹೇಶ್ವರಾ. ॥೨೮೧॥

೫೯೨

ಹತ್ತು ಬಣ್ಣದ ಗಿಡುವಿಂಗೆ,
ಹತ್ತೆಲೆ, ಹತ್ತು ಹೂ, ಹತ್ತು ಕಾಯಾಯಿತ್ತು.
ಹತ್ತು ಹತ್ತು ಘನದಲ್ಲಿ ಅಳವಟ್ಟು,
ಹತ್ತು ಹತ್ತು ಆಚಾರಕ್ರಮದಲ್ಲಿ ವಿಚಾರವ ಕಾಣಬಲ್ಲಡೆ
ಆ ಕಾಯ ಲಿಂಗ ಉದಯ (ಲಿಂಗಮಯ?)ವಹುದು ಕಾಣಾ
ಗುಹೇಶ್ವರಾ. ॥೨೮೨॥

೫೯೩

ಪ್ರಾಣ, ಲಿಂಗದಲ್ಲಿ ಸಮನಿಸದು; ಲಿಂಗ ಪ್ರಾಣದಲ್ಲಿ ಸಮನಿಸದು.
ಪ್ರಾಣ ಲಿಂಗ, ಲಿಂಗ ಪ್ರಾಣವೆಂಬುದು
ಸಂದು ಸಂಶಯವಲ್ಲದೆ ನಿಜವ ಕೇಳಾ.
ದಶಪ್ರಾಣವಳಿದು ಲಿಂಗವೆ ತಾನೆಂದರಿಯ ಬಲ್ಲಡೆ
ಅದೇ ಪ್ರಾಣಲಿಂಗ ಗುಹೇಶ್ವರಾ ! ॥೨೮೩॥

೫೯೪

ತನು ಒಂದು ದ್ವೀಪ, ಮನ ಒಂದು ದ್ವೀಪ,
ಆಪ್ಯಾಯನ ಒಂದು ದ್ವೀಪ, ವಚನ ಒಂದು ದ್ವೀಪ.–
ಇಂತೀ ನಾಲ್ಕು ದ್ವೀಪದೆಡೆಯ ಬೆಸಗೊಂಬಡೆ
ಗುಹೇಶ್ವರಾ–ನಿಮ್ಮ ಸ್ಥಾನಂಗಳು. ॥೨೮೪॥

೫೯೫

ಆದಿಯಲ್ಲಿ ಶಿವದಾರವ ಕಂಡೆ; ಬೀದಿಯಲ್ಲಿ ಬಿದ್ದ ಸೆಜ್ಜೆಯ ಕಂಡೆ.
ಪ್ರಾಣಲಿಂಗವ ಬೈಚಿಟ್ಟುಕೊಂಡೆ.

ಕಾಯವಳಿದು ಜೀವ ನಿಮ್ಮಲ್ಲಿಗೆ ಬಂದಡೆ
ಎನ್ನಿಂದ ವ್ರತಗೇಡಿಗಳಿಲ್ಲ ಗುಹೇಶ್ವರಾ. ॥೨೮೫॥

೫೯೬

ಇದ್ದುದ ಹೇಳಲಿಲ್ಲ, ಇದ್ದುದ ತೋರಲಿಲ್ಲ,
ಹೊದ್ದಿದ ಆಶ್ರಮವ ನಾನೇನೆಂಬೆನು ಶಿವನೆ?
ಭದ್ರಕಾಳಿಯ ಬಸಿರೊಳಗಿರ್ದ ಬಾವಿಯ ಸರ್ಪನು,
ಸಿದ್ಧರಸದ ಘುಟಿಕೆಯ ನುಂಗಿ ಎದ್ದು ಆಡಿತ್ತು ನೋಡಾ !
ಹದ್ದಿನ ಹೆಡೆಯಲ್ಲಿ ಮಾಣಿಕವಿದ್ದುದು
ಇಲ್ಲೆಂಬ ಎದ್ದು ಹೇಳುವ ಕನಸು ತಾನಲ್ಲ ಗುಹೇಶ್ವರ. ॥೨೮೬॥

೫೯೭

ಅದ್ವೈತನ ಕರಸ್ಥಲದೊಳಗೆ, ಅನಂತನೆಂಬ ಗಿಳಿ ಮೂರ್ತಗೊಂಡು
ಅತೀತ ಅನಾಗತ ವರ್ತಮಾನವೆಂಬ ಕೊರೆಕೂಳನುಂಡು
ಓದಿತ್ತು ಅಗಣಿತ ಪುರಾಣ(ವ), ಅನಾಮಯ ಶಾಸ್ತ್ರವನು,
ಅನುಪಮ ವೇದವೆಂದು.–
ನಿಃಸ್ಥಲವ ಸ್ಥಲವಿಡಲು,
ನಿರ್ಮಳಾತ್ಮಂಗೆ ಇಹವಿಲ್ಲ ಪರವಿಲ್ಲ !
ಆದಿ ಮಧ್ಯಾಂತ ನಿರಾಳ ಗುಹೇಶ್ವರನ ಅನುಭವಿಗೆ
ಸರ್ವಾಂಗ ಲಿಂಗವು ! ॥೨೮೭॥

೫೯೮

ಅಂಗೈಯೊಳಗಣ ಸಿಂಹಾಸನವಿದೇನೊ?
ಅಂಗೈಯ ಮೇಲೆ ಸಿಂಹಾಸನವೇದೇನೊ?
ಧೂಪ ದೀಪ ನಿವಾಳಿಯೆಂದೇನೊ?
ಶರಣಂಗೆ ಕಳಸದ ಮೇಲೆ ನೆಲೆಗಟ್ಟೆಯೆಂಬುದೇನೊ?
ಗುಹೇಶ್ವರನೆಂಬ ನಿರಾಳ ! ॥೨೮೮॥

೫೯೯

ಕಂಗಳಲ್ಲಿ ನಟ್ಟ ಗಾಯವನಾರಿಗೆ ತೋರಬಹುದಯ್ಯಾ?
ಮನ ಸೋಂಕಿದ ಸುಖವ ಮೊಟ್ಟೆಯ ಕಟ್ಟಬಹುದೆ?

ಆತ ನಿಂದ ನಿಲವಾತಂಗೆ ಸಾಧ್ಯವಾಯಿತ್ತು.
ಆತ ನಿಂದ ನಿಲವನೇನೆಂಬೆ ಗುಹೇಶ್ವರಾ. ॥೨೮೯॥

೬೦೦

ಅರಿದೆಹೆ ಅರಿದೆಹೆನೆಂದಡೆ ಅದೇಕೊ ಮುಂದೆ ಮರವೆ?
ನೀನರಿದೆನೆಂಬುದು ನಿನ್ನಲ್ಲಿ ಲೇಸಾಗಿ ಉಳ್ಳಡೆ,
ನಿನ್ನರಿವೆಲ್ಲವ ಹರಿಹಂಚ ಮಾಡಿ ಹೋದಡರಿ ಮರುಳೆ !
ಸ್ವತಂತ್ರ ಘನದೊಳಗಿರ್ದು, ನಿಜವನರಿದಿಹೆನೆಂದಡೆ
ಮೂರ್ತಿ ಕಿರಿದಲ್ಲ, ನಿಲ್ಲು ಮಾಣು.
ಗುಹೇಶ್ವರನೆಂಬ ಲಿಂಗದ ಘನಘಟ್ಟಿಯನರಿವಡೆ
ನಿನ್ನರಿವೆಲ್ಲವ ಹರಿಹಂಚು ಮಾಡಿ.
ನೀನರಿ ಮರುಳೇ – ಅನುಭಾವಿಯಾದಡೆ. ॥೨೯೦॥

೬೦೧

ಎನ್ನ ಕಂಗಳೊಳಗಣ ರೂಹಿಂಗೆ ಅನು ಬೇಟಗೊಂಡು ಬಳಲುವಂತೆ,
ಹಿಡಿದು ನೆರೆಯಲಿಲ್ಲಯ್ಯಾ.
ತುರೀಯದ ತವಕವನೇನೆಂಬೆನಯ್ಯಾ.
ಸಂಗಸಂಯೋಗವಿಲ್ಲದ ರತಿಸುಖವನರಸಲುಂಟೆ?
ಗುಹೇಶ್ವರಲಿಂಗದ ಕೃತಕದಾಳಿಯನೇನೆಂಬೆ? ॥೨೯೧॥

೬೦೨

ಅರುವೆಯನು ಒಂದು ಒರಲೆ ಕೊಂಡಡೆ,
ಆಕಾಶವನು ಉಡು ಮೇಯಿತ್ತಲ್ಲಾ !
ಕತ್ತಲೆಯ ಬೆಳಗುವ ತಾನೆ ನುಂಗಿತ್ತಲ್ಲಾ !
ಗುಹೇಶ್ವರಾ ಸತ್ತವರು ಬದುಕಿದವರ ಹೊತ್ತರು ! ॥೨೯೨॥

೬೦೩

ಉರಿವ ಕಿಚ್ಚಿನೊಳಗೆ ಹಾಯ್ಕಿದಡೆ.
ಬೆಂದಿತ್ತೆಂದರಿಯಬಾರದು ಬೇಯದೆಂದರಿಯಬಾರದು.
ಹಿಡಿದು ಸುಟ್ಟು ಬೂದಿಯ ಹೂಸಿಕೊಂಡಡೆ
ಮರಳಿ ಹುಟ್ಟಲಿಲ್ಲ ಕಾಣಾ ಗುಹೇಶ್ವರಾ. ॥೨೯೩॥

೬೦೪

ತನ್ನರಿದವಂಗೆ ಇದಿರೆಂಬುದಿಲ್ಲ, ತನ್ನರಿಯದವಂಗೆ ಇದಿರೆಂಬುದುಂಟು.
ಅರುಹು ಮರಹು ಕುರುಹಳಿಯಿತ್ತು, ಬೆರಗಾಯಿತ್ತು.
ಬೆರಗು ಬೆರಗಿನೊಳಗೆ ಕರಗೊಂಡಿತ್ತು ಇದೇನೊ?
ಭ್ರಾಂತು ಭ್ರಾಂತನೆ ನುಂಗಿ
ಗುಹೇಶ್ವರ ಭವಿಯ ಬೆಂಬತ್ತಿ ಭವಿಯಾದ ಕಾರಣ ! ॥೨೯೪॥

೬೦೫

ಕೆಂಡದ ಗಿರಿಯ ಮೇಲೊಂದು, ಅರಗಿನ ಕಂಬವಿದ್ದಿತ್ತು ನೋಡಯ್ಯಾ.
ಅರಗಿನ ಕಂಬದ ಮೇಲೆ ಹಂಸೆಯಿದ್ದಿತ್ತು.
ಕಂಭ ಬೆಂದಿತ್ತು ಹಂಸೆ ಹಾರಿತ್ತು ಗುಹೇಶ್ವರಾ ! ॥೨೯೫॥

**ಸೂತ್ರ :** ಇಂತು ಶರಣಸ್ಥಲದಲ್ಲಿ ಜ್ಞಾನಮುಖದಿಂದಾಚರಿಸಿ ಐಕ್ಯವಾದ ಶರಣನು ಮುಂದೆ ಸಮರಸದಿಂದಾಚರಿಸಿ ಬೆರಸಿ ನಿರಾಳದಲ್ಲಿ ವಿಶ್ರಾಂತಿಯನೈದುವ ಭೇದವೆಂತಿದ್ದುದೆಂದಡೆ ಮುಂದೆ ಐಕ್ಯಸ್ಥಲವಾದುದು.



೬೦೭

ಸತ್ತು ಹುಟ್ಟಿ ಕೆಟ್ಟವರೆಲ್ಲರು,
ದೇವಲೋಕಕ್ಕೆ ಹೋದರೆಂಬ ಬಾಲಭಾಷೆಯ ಕೇಳಲಾಗದು.
ಸಾಯದ ಮುನ್ನ ಸ್ವಯವನರಿದಡೆ
ದೇವನೊಲಿವ ನಮ್ಮ ಗುಹೇಶ್ವರನು. ॥೧॥

೬೦೭

ಕೋಣನನೂ ಕುದುರೆಯನೂ; ಹಾವನೂ ಹದ್ದನೂ;
ಮೊಲನನೂ ನಾಯನೂ, ಇಲಿಯನೂ ಬೆಕ್ಕನೂ,
ಹುಲಿಯನೂ ಹುಲ್ಲೆಯನೂ– ಮೇಳೈಸುವಂತೆ
ಮೇಳವಿಲ್ಲದವನ ಒಕ್ಕತನ, ಅಳಿಯ ಬಾಳುವೆ,
ಕಾಡಬೆಕ್ಕಿಂಗೆ ತುಯ್ಯಲನಿಕ್ಕುವಂತೆ !– ಕೇಳು ಗುಹೇಶ್ವರಾ
ನಿರಾಳ ಬೋಳಿಂಗೆ ತೊಂಡಿಲ ಮುಡಿಸುವಂತೆ ! ॥೨॥

೬೦೮

ಲಿಂಗವಂತಂಗೆ ಲಿಂಗದ ವಾರ್ತೆಯ ನುಡಿವುದೇ ಭಂಗ,
ಹಂಗು ನೋಡಾ, ಹಂಗಿನ ಶಬ್ದ ನೋಡಾ !
ಕೊಡನ ತುಂಬಿದ ಹಾಲನೊಡೆಯ ಹಾಯಿಕಿ
ಇನ್ನು ಉಡುಗಿಹೆನೆಂದಡೆ ಉಂಟೆ ಗುಹೇಶ್ವರಾ? ॥೩॥

೬೦೯

ಶಬ್ದ ಸಂಭ್ರಮದಲ್ಲಿ ಹಿಂದುಗಾಣರು ಮುಂದುಗಾಣರು,
ತಮ್ಮ ತಾವರಿಯರು.
ಇದು ಕಾರಣ– ಮೂರು ಲೋಕವೆಲ್ಲವು,
ಬರುಸೂರೆವೋಯಿತ್ತು ಗುಹೇಶ್ವರಾ. ॥೪॥

೬೧೦

ಉರವಣಿಸುವ ಮನ ಮುಟ್ಟುವನ್ನಬರ ಕಾಡುವುದು
ಘನ ಘನದಲ್ಲಿ ಮನ ನಂಬುವನ್ನಬರ ಕಾಡುವುದು.
ಮಹಂತ ಗುಹೇಶ್ವರನೆಂಬ ಶಬ್ದವುಳ್ಳನ್ನಬರ ಕಾಡುವುದು. ॥೫॥

೬೧೧

ಕದನದೊಳಗಣ ಕಣ್ಣ ಕೆಂಪು, ಕದನದೊಳಗಣ ಮನದ ಕೆಂಪು
ಇದಾವನಾವನ ಕಾಡದಯ್ಯಾ ?
ಪದುಮದೊಳಗೆ ಬಿಂದು ಸಿಲುಕಿ ಅಲ್ಲಿಯೆ ಅದೆ ನೋಡಿರೆ !
ಗುಹೇಶ್ವರನೆಂಬ ಅನುಗ್ರಹ ತನ್ನ ನುಂಗಿ ಲಿಂಗವಿಲ್ಲೆನುತ್ತಿರ್ದೆನು(ದ್ದಿತು?) ॥೬॥

೬೧೨

ಭಾವವಳಿಯದೆ ಬಯಕೆ ಸವೆಯದೆ
ಐಕ್ಯವು ಅವ ಘನವೆಂದಡಹುದೆ?
ಶಬ್ದ ಸಂಭ್ರಮದ ಮದವಳಿಯದೆ,
ತನ್ನ ಇದಿರಲ್ಲಿ ಪ್ರತಿಯುಳ್ಳಡೆ, ಏನೆಂದಡೂ ಅಹುದೆ?
ಗುಹೇಶ್ವರನೆಂಬ ಶಬ್ದಸಂದಳಿಯದೆ
ಬೇಸತ್ತು ಬಯಲಾದಡೆ ಆಯತವಹುದೆ? ॥೭॥

೬೧೩

ಕೆರೆಯಲುಂಡು ತೊರೆಯ ಹೊಗಳುವರು.
ಅತ್ಯುತ್ಕಟದ ಪರಬ್ರಹ್ಮವನೆ ನುಡಿವರು.
ಸಹಜ ಪಿನಾಕಿಯ ಬಲೆಯಲ್ಲಿ ಸಿಲುಕಿ
ಭವವ ಹರಿಯಲರಿಯರು.
ರುದ್ರನ ಛತ್ರವನುಂಡು ಇಲ್ಲವೆಯ ನುಡಿವ ಹಿರಿಯರಿಗೆ
ಮಹದ ಮಾತೇಕೋ ಗುಹೇಶ್ವರಾ? ॥೮॥

೬೧೪

ಪಂಚಭೂತಸಂಗದಿಂದ ಜ್ಯೋತಿಯಾಯಿತ್ತು.
ಪಂಚಭೂತಸಂಗದಿಂದ ಕರ್ಪೂರವಾಯಿತ್ತು.
ಈ ಎರಡರ ಸಂಗವೇನಾಯಿತ್ತು, ಹೇಳಾ ವಾಙ್ಮನಾತೀತ ಗುಹೇಶ್ವರಾ ? ॥೯॥

೬೧೫

ಎರಡೆಂಬರಯ್ಯಾ ಕರಣದ ಕಂಗಳಲ್ಲಿ ನೋಡಿದವರು.
ಎರಡುವನತಿಗಳೆದು ಒಂದೆಂಬರಯ್ಯಾ.
ಕಾಮಿಸೂದಿಲ್ಲಾಗಿ ಕಲ್ಪಿಸೂದಿಲ್ಲ.

ಭಾವಿಸೂದಿಲ್ಲಾಗಿ ಬಯಸೂದಿಲ್ಲ.
ಗುಹೇಶ್ವರನೆಂಬುದಿಲ್ಲಾಗಿ ಮುಂದೆ ಬಯಲೆಂಬುದೂ ಇಲ್ಲ. ||೧೦||

೬೧೬

ಹುಲ್ಲ ಕಿಚ್ಚುವ, ಕಲ್ಲ ಬೀಜವ, ನೀರ ನೆಳಲುವ,
ಗಾಳಿಯ ನಾರುವ, ಅಗ್ನಿಯ ಹಗಿನುವ, ಬಿಸಿಲಿನ ರುಚಿಯ
ತನ್ನ ಬೆಳಗುವನಾರು ಬಲ್ಲರು ಗುಹೇಶ್ವರಾ ನಿಮ್ಮ ಶರಣರಲ್ಲದೆ ? ||೧೧||

೬೧೭

ಹೊರಸಿನೆಕ್ಕೆಯ ಶಂಖದ ಮಣಿಯ ಪವಣಿಸಬಲ್ಲವರು
ನೀವಾರಾದಡೂ ಪವಣಿಸಿರಯ್ಯಾ.–ಇದ ನಾನರಿಯೆನಯ್ಯಾ.
ಒಂದು ತಾಳಮರದ ಮೇಲೆ ಮೂರು ರತ್ನವಿಹುದ ನಾ ಬಲ್ಲೆ:
ಒಂದು ರತ್ನ ಉತ್ಪತ್ಯ–ಸ್ಥಿತಿ–ಲಯಕ್ಕೊಳಗಾಯಿತ್ತು.
ಒಂದು ರತ್ನ ಹದಿನಾರು ಭುವನಕ್ಕೆ ಬೆಲೆಯಾಯಿತ್ತು.
ಇನ್ನೊಂದು ರತ್ನಕ್ಕೆ ಬೆಲೆಯಿಲ್ಲವೆಂದು
ಗುಹೇಶ್ವರ ಲಿಂಗೈಕ್ಯವು.–ನಿಶ್ಶಬ್ದಂ ಬ್ರಹ್ಮ ಉಚ್ಯತೇ. || ೧೨||

೬೧೮

ಅಂಗದ ಧರೆಯ ಮೇಲೆ ಮೂರು ಬಾವಿಯುಂಟು:
ಮೊದಲ ಬಾವಿಯ ಮುಟ್ಟಿದಾತ ಅಂಗಸಂಗಿಯಾದನು.
ನಡುವಡ ಬಾವಿಯ ಮುಟ್ಟಿದಾತ ಉತ್ಪತ್ಯ–ಸ್ಥಿತಿ–ಲಯಕ್ಕೊಳಗಾದನು.
ಮೇಲಣ ಬಾವಿಯ ಮುಟ್ಟಿದಾತ ಜೀವನ್ಮುಕ್ತನಾದನು.–
ಇವ ತಟ್ಟದೆ ಮುಟ್ಟದೆ ಹೋದರು ನೋಡಾ, ಪರಬ್ರಹ್ಮವ ದಾಂಟಿ,
ಗುಹೇಶ್ವರಲಿಂಗದಲ್ಲಿ ಹಂಗು ಹರಿದ ಶರಣರು ! || ೧೩ ||

೬೧೯

ಒಟ್ಟೆಯ ಮರಿ ಮೂರೊಟ್ಟೆಯನಿಕ್ಕಿತ್ತು.
ಕಟ್ಟುಗ್ರದಿರುಹೆ ಕತ್ತಲೆಯ ನುಂಗಿತ್ತು.
ಬೆಟ್ಟವ ಬೆಳ್ಳಕ್ಕಿ ನುಂಗಿತ್ತು.
ಸುಟ್ಟುದು ಎದ್ದು ಕುಳ್ಳಿದ್ದುದಯ್ಯಾ.
ಕಟ್ಟಿರ್ದುದು ತೋರದೆ ಗುಹೇಶ್ವರನಲ್ಲಿಯೆ ಅಡಗಿತ್ತು ನೋಡಾ ! || ೧೪ ||

೬೨೦

ಸ್ಥೂಲವ ಬ್ರಹ್ಮನಳವಡಿಸಿಕೊಂಡ.
ಸೂಕ್ಷ್ಮವ ವಿಷ್ಣುವಳವಡಿಸಿಕೊಂಡ.
ಕಾರಣವ ರುದ್ರನಳವಡಿಸಿಕೊಂಡ.
ನಿಃಕಾಯವ ಈಶ್ವರನಳವಡಿಸಿಕೊಂಡ.
ನಿರಂಜನವ ಸದಾಶಿವನಳವಡಿಸಿಕೊಂಡ.
ನಿರವಯವ ವ್ಯೋಮಾತೀತನಳವಡಿಸಿಕೊಂಡ.
ಈ ಷಡುಸ್ಥಲದವರೆಲ್ಲ ಬಯಲನಳವಡಿಸಿಕೊಂಡು
ಬಯಲಾಗಿತ್ತು ಕಾಣಾ ಗುಹೇಶ್ವರಾ. ॥೧೫॥

೬೨೧

ಪೃಥ್ವಿಯೊಳಗಿಲ್ಲ, ಆಕಾಶದೊಳಗಿಲ್ಲ,
ಚತುರ್ದಶ ಭುವನಾದಿ ಭುವನಂಗಳೊಳಗೆಯೂ ಇಲ್ಲ.
ಹೊರಗೆಯೂ ಇಲ್ಲ – ಏನಾಯಿತ್ತೆಂದರಿಯೆನಯ್ಯಾ.
ಗುಹೇಶ್ವರ ಅಂದೂ ಇಲ್ಲ ಇಂದೂ ಇಲ್ಲ ಎಂದೂ ಇಲ್ಲ. ॥೧೬॥

೬೨೨

ಹುಟ್ಟುವಾತ ನಾನಲ್ಲಯ್ಯಾ, ಹೊಂದುವಾತ ನಾನಲ್ಲಯ್ಯಾ.
ಅದೇನೆಂಬೆನಯ್ಯಾ ಎಂತೆಂಬೆನಯ್ಯಾ?
ನಿಜವನರಿದ ಬಳಿಕ ಮತ್ತೆ ಹುಟ್ಟಲುಂಟೆ ಗುಹೇಶ್ವರಾ. ॥೧೭॥

೬೨೩

ಅರಿದೆನೆಂಬುದು ತಾ ಬಯಲು,
ಅರಿಯೆನೆಂಬುದು ತಾ ಬಯಲು,
ಅರುಹಿನ ಕುರುಹಿನ ಮರಹಿನೊಳಗೆ
ಗುಹೇಶ್ವರನೆಂಬುದು ತಾ ಬಯಲು ! ॥೧೮॥

೬೨೪

ಹೊಸ ಮುತ್ತಿನ ಸುಪ್ಪಾಣಿಯಂತೆ ಲಿಂಗೈಕ್ಯವು.
ಸ್ಫಟಿಕದ ಘಟದೊಳಗಣ ಪ್ರಭೆಯಂತೆ ಲಿಂಗೈಕ್ಯವು.

ವಾಯುವಿನ ಸಂಚದ ಪರಿಮಳದ ನಿಲವಿನಂತೆ
ಲಿಂಗೈಕ್ಯ ಸಂಬಂಧವದು ಗುಹೇಶ್ವರಾ. ||೧೯||

೬೨೫

ಅರಿದರಿದು ಅರಿವು ಬಂಜೆಯಾಯಿತ್ತು.
ಮರೆ ಮರೆದು ಮರಹು ಬಂಜೆಯಾಯಿತ್ತು.
ಗುಹೇಶ್ವರನೆಂಬ ಶಬ್ದ ಸಿನೆ ಬಂಜೆಯಾಯಿತ್ತು. ||೨೦||

೬೨೬

ಹಸಿವಿನ ಪ್ರೇಮಕ್ಕೆ ಬೋನವ ಹಿಡಿವರು.
ತೃಷೆಯ ಪ್ರೇಮಕ್ಕೆ ಮಜ್ಜನಕ್ಕೆರೆವರು.
ದೇವರಿಲ್ಲ ಭಕ್ತರಿಲ್ಲ; ನಾನೂ ಇಲ್ಲ ನೀನೂ ಇಲ್ಲ;
ಗುಹೇಶ್ವರಾ, ಪೂಜಿಸುವರೂ ಇಲ್ಲ, ಪೂಜೆಗೊಂಬವರೂ ಇಲ್ಲ. ||೨೧||

೬೨೭

ಎಂಬತ್ತು (ಎರಡೆಂಬತ್ತು?) ಕೋಟಿ ವಚನವ ಹಾಡಿ
ಹಲವ ಹಂಬಲಿಸಿತ್ತೆನ್ನ ಮನವು,
ಮನ ಘನವನರಿಯದು, ಘನ ಮನವನರಿಯದು.
ಗುಹೇಶ್ವರನೆಂಬ ಲಿಂಗವನರಿದ ಬಳಿಕ
ಗೀತವೆಲ್ಲ ಒಂದು ಮಾತಿನೊಳಗು ! ||೨೨||

೬೨೮

ಅವಿರಳ ವಿಟನ ಮದುವೆಗೆ ನಿಬ್ಬಣಗಿತ್ತಿಯರೆಲ್ಲ ಬಂದು
ಕೆಂಡದ ದಂಡೆಯನೆ ಮುಡಿದು, ಅಂಡಜವೆಂಬ ಅರಿಷಿಣವ ಮಿಂದು,
ಉರಿಯೆಂಬ ಹಚ್ಚಡದ ಹೊಂದಿಕೆ (ಹೊದಿಕೆ?)ಯಲ್ಲಿ –
ನಿಬ್ಬಣಗಿತ್ತಿಯರು ಬಪ್ಪ ಭರವ ಕಂಡು ನೀರಲಡಿಗೆಯ ಮಾಡಿ;
ವಾಯದ ಕೂಸಿಂಗೆ ಮಾಯದ ಮದವಣಿಗ;
ಸಂಗ ಸಂಯೋಗವಿಲ್ಲದೆ ಬಸುರಾಯಿತ್ತು.
ಕೂಸೆದ್ದು ಕುಣಿದಾಡಿ ಸೂಲಗಿತ್ತಿಯನವಗ್ರಹಿಸಿತ್ತು.
ಗುಹೇಶ್ವರಾ ಒಬ್ಬ ಇಬ್ಬ ಮೂವರು
ತ್ರಿದೇವತೆಗಳು ಬಲ್ಲರೆ ಆ ಲಿಂಗದ ಘನವನು? ||೨೩||

೬೨೯

ಸತ್ತಾತನೊಬ್ಬ ಹೊತ್ತಾತನೊಬ್ಬ,–
ಈ ಇಬ್ಬರನೂ ಒಯ್ದು ಸುಟ್ಟಾತನೊಬ್ಬ.
ಮದವಣಿಗನಾರೊ? ಮದವಳಿಗೆ ಯಾರೊ?
ಮದುವೆಯ ನಡುವೆ ಮರಣವಡ್ಡಬಿದ್ದಿತ್ತು.
ಹಸೆಯುಳಿಯದ ಮುನ್ನ ಮದವಣಿಗನಳಿದ.
ಗುಹೇಶ್ವರಾ–ನಿಮ್ಮ ಶರಣನೆಂದೂ ಅಳಿಯ. ॥೨೪॥

೬೩೦

ಪಾದವಿಲ್ಲದ ಗುರುವಿಂಗೆ ತಲೆಯಿಲ್ಲದ ಶಿಷ್ಯನು.
ಅನಾಚಾರಿ ಗುರುವಿಂಗೆ ವ್ರತಗೇಡಿ ಶಿಷ್ಯನು.
ಈ ಗುರುಶಿಷ್ಯರಿಬ್ಬರೂ ಸತ್ತ ಸಾವ, ನಿಮ್ಮಲ್ಲಿ ಅರಸುವೆ ಗುಹೇಶ್ವರಾ. ॥೨೫॥

೬೩೧

ಕಕ್ಷೆಯಲ್ಲಿ ಲಿಂಗವ ಧರಿಸಿಕೊಂಡಾತನು ಬ್ರಹ್ಮನು.
ಕರಸ್ಥಲದಲ್ಲಿ ಲಿಂಗವ ಧರಿಸಿಕೊಂಡಾತನು ವಿಷ್ಣುವು.
ಉತ್ತಮಾಂಗದಲ್ಲಿ ಲಿಂಗವ ಧರಿಸಿಕೊಂಡಾತನು ರುದ್ರನು.
ಅಮಳೋಕ್ಯದಲ್ಲಿ ಲಿಂಗವ ಧರಿಸಿಕೊಂಡಾತನು ಈಶ್ವರನು.
ಮುಖಸೆಜ್ಜೆಯಲ್ಲಿ ಲಿಂಗವ ಧರಿಸಿಕೊಂಡಾತನು ಸದಾಶಿವನು.
ಅಂಗಸೆಜ್ಜೆಯಲ್ಲಿ ಲಿಂಗವ ಧರಿಸಿಕೊಂಡಾತನು ಉಪಮಾತೀತನು–
ಇವರೆಲ್ಲರೂ ಬಯಲನೆ ಪೂಜಿಸಿ ಬಯಲಾಗಿ ಹೋದರು.
ನಾನು ನಿತ್ಯವ ಪೂಜಿಸಿ ಮಿಥ್ಯವಳಿದ ಇರವಿನಲ್ಲಿ
ಸುಖಿಯಾದೆನು ಗುಹೇಶ್ವರಾ. ॥೨೬॥

೬೩೨

ಹೊರಗನೆ ಕೊಯ್ದು ಹೊರಗನೆ ಪೂಜಿಸಿ
ಹೊರಗಾಗಿ ಹೋಯಿತ್ತು ತ್ರೈಜಗವೆಲ್ಲ.
ಆನದನರಿಯದಂತೆ ಲಿಂಗವ ಪೂಜಿಸ ಹೋದಡೆ,
ಕೈ ಲಿಂಗದಲ್ಲಿ ಸಿಲುಕಿತ್ತಲ್ಲಾ !
ಮನ ದೃಢದಿಂದ ನಿಮ್ಮ ನೆನೆದಿಹೆನೆಂದಡೆ
ತನು ಸಂದಣಿಸಿತ್ತು ಗುಹೇಶ್ವರಾ. ॥೨೭॥

೬೩೩

ಶಯನಾಸನ ಪರವಿಲ್ಲೆಂದುದು.
ಜ್ಞಾನಾಜ್ಞಾನ ಭಾವ ನೋಟ ತಾನಲ್ಲ,
ಅರಿವಿನ ಭಾವ ಸ್ವತಂತ್ರವಿಲ್ಲ ಕಾಣಾ.
ಆಕಾಯದಲ್ಲಿ ಅದ್ವೈತ ಚರಿತ್ರ;
ಅರಿವಿನಲನುಗ್ರಹಿಸಿ ಸಕಾಯದಲ್ಲಿ ಸದ್ಯೈವ ಚರಿತ್ರ.
ಮರಹು ಉದಯಿಸದ ನಿರುಗೆಯ ಪವನ ಬ್ರಹ್ಮರಂಧ್ರರಹಿತ !
ಶಯನಾಸನವೆಂದಲ್ಲಿ ಗುಹೇಶ್ವರನೆನಲು ಹೇಸಿತ್ತು. ॥೨೮॥

೬೩೪

ನೀರಿಲ್ಲದ ಒರಳಿಂಗೆ ನೆಳಲಿಲ್ಲದ ಒನಕೆ !
ರೂಹಿಲ್ಲದ ನಾರಿಯರು ಬೀಜವಿಲ್ಲದಕ್ಕಿಯ ತಳಿಸುತ್ತಲಿ
ಬಂಜೆಯ ಮಗನ ಜೋಗುಳವಾಡುತ್ತೈದಾರೆ,
ಉರಿಯ ಚಪ್ಪರವನಿಕ್ಕಿ–
ಗುಹೇಶ್ವರನ ಕಂದನು ಲೀಲೆಯಾಡಿದನು ! ॥೨೯॥

೬೩೫

ಅರಿದು ನೆನೆಯಲಿಲ್ಲ, ಮರೆದು ಪೂಜಿಸಲಿಲ್ಲ.
ತೆರಹಿಲ್ಲದ ಘನಕ್ಕೆ ಕುರುಹು ಮುನ್ನಿಲ್ಲ.
ತನಗೆ ಗುರುವಿಲ್ಲ, ಗುರುವಿಗೆ ತಾನಿಲ್ಲ
ಗುರುವಿಗೆ ಶಿಷ್ಯನು ಹೊಡವಡುವ ಕಾರಣ ಮುನ್ನಿಲ್ಲ.
ಬಯಲ ಬಿತ್ತಲಿಲ್ಲ, ಬೆಳೆಯಲಿಲ್ಲ, ಒಕ್ಕಲಿಲ್ಲ, ತೂರಲಿಲ್ಲ,
ಗುಹೇಶ್ವರನೆಂಬ ಲಿಂಗಕ್ಕೆ ಕುರುಹು ಮುನ್ನಿಲ್ಲ. ॥೩೦॥

೬೩೬

ದೃಷ್ಟಕ್ಕೆ ದೃಷ್ಟ ಮುಂದಿಲ್ಲ, ಇಲ್ಲ.
ಮಾಡಿದಡೇನಹುದೊ? ಮಾಡದಿರ್ದಡೇನಹುದೊ?
ಗುಹೇಶ್ವರನೆಂಬ ಅರುಹಿನ ಕುರುಹು ಮಂದಿಲ್ಲ, ಇಲ್ಲ.
ಮಾಡಿದಡೇನಹುದೊ? ॥೩೧॥

೬೩೭

ನಿಜವನರಿಯದ ನಿಶ್ಚಿಂತನೆ, ಮರಣವ ಗೆಲಿದ ಮಹಂತನೆ,
ಘನವ ಕಂಡ ಮಹಿಮನೆ, ವರವನೊಳಕೊಂಡ ಪರಿಣಾಮಿಯೆ,
ಬಯಲಲೊದಗಿದ ಭರಿತನೆ,
ಗುಹೇಶ್ವರಲಿಂಗನಿರಾಳವನೊಳಕೊಂಡ ಸಹಜನೆ ! ॥೩೭॥

೬೩೮

ಭವಿಯ ಕಳೆದೆಹೆವೆಂಬ ಅಪ್ರಮಾಣಿಗಳು ನೀವು ಕೇಳಿರೆ,
ಭವಿಯ ಕಳೆದೆಹೆವೆಂಬ ಭವಭಾರಿಗಳು ನೀವು ಕೇಳಿರೆ;
ಭವಿಗೆ ಕೊಡಲಾಗದೆಂಬ ಭಕ್ತನ ನುಡಿಯ ಕೇಳಲಾಗದು.
ನಾನು ಭವಿವಿಡಿದು ಭಕ್ತಿಯಿಂದ ಸುಖಿಯಾದೆ ಗುಹೇಶ್ವರಾ !! ॥೩೩॥

೬೩೯

ಬಯಲು ಬಯಲನೆ ಬಿತ್ತಿ ಬಯಲು ಬಯಲನೆ ಬೆಳೆದು
ಬಯಲು ಬಯಲಾಗಿ ಬಯಲಾಯಿತ್ತಯ್ಯಾ.
ಬಯಲ ಜೀವನ ಬಯಲ ಭಾವನೆ,
ಬಯಲು ಬಯಲಾಗಿ ಬಯಲಾಯಿತ್ತಯ್ಯಾ.
ನಿಮ್ಮ ಪೂಜಿಸಿದವರು ಮುನ್ನವೆ ಬಯಲಾದರು
ನಾ ನಿಮ್ಮ ನಂಬಿ ಬಯಲಾದೆ ಗುಹೇಶ್ವರಾ. ॥೩೪॥

೬೪೦

ನಾರು ಬೇರಿನ ಕುಟಿಲ ಕಪಟದ
ಯೋಗವಲ್ಲಿದು ನಿಲ್ಲಿ ಭೋ.
ಕಾಯಸಮಾಧಿ ಕರಣಸಮಾಧಿ–
ಯೋಗವಲ್ಲಿದು ನಿಲ್ಲಿ ಭೋ.
ಜೀವಸಮಾಧಿಯೆಂಬುದಲ್ಲ,
ನಿಜ ಸಹಜಸಮಾಧಿ ಗುಹೇಶ್ವರಾ ! ॥೩೫॥

೬೪೧

ವಸ್ತುಕ ವರ್ಣಕ ತ್ರಿಸ್ಥಾನದ ಮೇಲೆ ನುಡಿವ ನುಡಿಗಳು
ಇತ್ತಿತ್ತಲಲ್ಲದೆ ಅತ್ತತ್ತಲಾರು ಬಲ್ಲರು.

ಇವರೆತ್ತಲೆಂದರಿಯರು – ಗಿಳಿವಿಂಡುಗೆಡೆವರು ನಿಮ್ಮನೆತ್ತಬಲ್ಲರು
ಗುಹೇಶ್ವರಾ ? ॥೩೬॥

೬೪೨

ಅಕ್ಷರದಲಭ್ಯಾಸವ ಮಾಡಿ ಬರೆವ ತೊಡೆವ ಪರಿಯಿನ್ನೆಂತೊ?
ಸ್ವರೂಪವೆಂಬುದಾವುದು ನಿರೂಪವೆಂಬುದಾವುದು ಅರಿಯರಾಗಿ,
ಆದಿನಿರಾಳ ಮಧ್ಯನಿರಾಳ ಊರ್ಧ್ವನಿರಾಳ ಗುಹೇಶ್ವರ. ॥೩೭॥

೬೪೩

ಕೈಯಲ್ಲಿ ಕರಸ್ಥಲ ಮನದಲ್ಲಿ ಪರಸ್ಥಲ,
ತನುವೆಲ್ಲ ಹುಸಿಸ್ಥಲ – ಶರಣನೆಂತೆಂಬೆ?
ಮಾತಿನಂತುಟಲ್ಲ ಕ್ರಿಯಾಸಮ (ಕ್ರಿಯಾಗಮ?) ಸ್ಥಲ.
ಉತ್ಪತ್ತ್ಯ – ಸ್ಥಿತಿ – ಲಯರಹಿತ ನಿಜಸ್ಥಲ,
ಗುಹೇಶ್ವರನೆಂಬ ಲಿಂಗೈಕ್ಯವೈಕ್ಯ. ॥ ೩೮ ॥

೬೪೪

ತೋರಿದ ಭೇದವ ತೋರಿದಂತೆ ಕಂಡಾತನಲ್ಲದೆ,
ದೃಷ್ಟಿವಾಳಕ ತಾನಲ್ಲ.
ಬೇರೊಂದ ವಿವರಿಸಿಹೆನೆಂದಡೆ,
ಆರ ಮೀರಿದಲ್ಲದೆ ಅರಿಯಬಾರದು.
ಅರಿವನರಿದು ಮರಹ ಮರೆಯದೆ,
ಮನದ ಬೆಳಗಿನೊಳಗಣ ಪರಿಯನರಿಯದೆ
ವಾದಿಸಿ ಕೆಟ್ಟು ಹೋದರು ಗುಹೇಶ್ವರಾ,
ಸಲೆ ಕೊಂಡ ಮಾರಿಂಗೆ ! ॥೩೯॥

೬೪೫

ಪರಿಣಾಮಪರಿಮಿತ ದೊರೆಕೊಂಡಾತಂಗೆ
ಬಳಿಕೇಕೊ ಬರು ಮಾತಿನವರೊಡನೆ ಗೋಷ್ಠಿ?
ಬಳಿಕೇಕೊ ಬರಿಯ ಸಂಭ್ರಮಿಗಳೊಡತಣ ಅನುಭಾವ?
ಐವತ್ತೆರಡಕ್ಷರ ತಮ್ಮಲ್ಲಿ ತಾವು ಉಲಿಯದಂತೆ ಉಲಿದವು,
ಗುಹೇಶ್ವರನೆಂಬ ಲಿಂಗವನರಿದಾತಂಗೆ ಬಳಿಕೇಕೊ? ॥೪೦॥

೬೪೬

ಒತ್ತಿ ಹಣ್ಣ ಮಾಡಿದಡೆ ಅದೆತ್ತಣ ರುಚಿಯಪ್ಪುದೊ?
ಕಾಮಿಸಿ ಕಲ್ಪಿಸಿ ಭಾವಿಸಿದಡೆ ಅದೆ ಭಂಗ.
ಭಾವಿಸುವ ಭಾವನೆಗಿಂದ ಸಾವು[ದೆ] ಲೇಸು ಕಾಣಾ ಗುಹೇಶ್ವರಾ. ॥೪೧॥

೬೪೭

ನಿಮ್ಮ ನೆನೆವುತ್ತಿದ್ದಿತ್ತು – ನೆನೆವ ಮುಖವಾವುದೆಂದರಿಯದೆ,
ಪೂಜೆಯ ಪೂಜಿಸುತ್ತಿದ್ದಿತ್ತು – ಪೂಜೆಯ ಮುಖವಾವುದೆಂದರಿಯದೆ;
ಆಡಿ ಹಾಡಿ ಬೇಡುತ್ತಿದ್ದಿತ್ತು – ಬೇಡುವ ಮುಖವಾವುದೆಂದರಿಯದೆ;
ಕಾಯದಲ್ಲಿ ಇಲ್ಲ, ಜೀವದಲ್ಲಿ ಇಲ್ಲ, ಭಾವದಲ್ಲಿ ಇಲ್ಲ;
ಭರಿತವು ಅದು ತಾನಪ್ಪುದು.
ತಾನಲ್ಲದುದೇನ ಹೇಳುವೆ ಕೌತುಕವ?
ಗುಹೇಶ್ವರನೆಂಬ ಹೆಸರೊಳಗಿದ್ದುದ
ಬೆಸಗೊಂಬವರಿಲ್ಲ ನಿರಾಳದ ಘನವ ! ॥೪೨॥

೬೪೮

ನಿತ್ಯ ನಿರಂಜನ ತಾನೆಂದರಿಯದೆ, 'ತತ್ತ್ವಮಸಿ' ಎಂದು
ಹೊರಗನೆ ಬಳಸಿ ಸತ್ತಿತ್ತಲ್ಲಾ ಜಗವೆಲ್ಲ ನಾಯ ಸಾವ !
ತಮ್ಮ ತಾವರಿಯದೆ,
ಸತ್ತವರ ಹೆಸರ ಪತ್ರವನೋದಿದಡೆ ಎತ್ತಣ ಮುಕ್ತಿ ಗುಹೇಶ್ವರಾ? ॥೪೩॥

೬೪೯

ಹುಟ್ಟಿದ ನೆಲೆಯ ತೃಷೆ ಬಿಡದವರಿಗೆ,
ಉದಕಲಿಂಗದ ಅನುಭಾವವೇಕೊ?
ಮಾತಿನ ಮಾತಿನ ಮಹಂತರು ಹಿರಿಯರು !
ಗುಹೇಶ್ವರನೆಂಬ ಲಿಂಗಸಾರಾಯ,
ತೋರದು ತೋರದು ಬಹುಮುಖಿಗಳಿಗೆ. ॥೪೪॥

೬೫೦

ಭೂಮಿಯೊಳಗಿಲ್ಲ ಆಕಾಶದೊಳಗಿಲ್ಲ:
ಚತುರ್ದಶ ಭುವನದೊಳಗಿಲ್ಲ, ಹೊರಗಿಲ್ಲ.

ಏನೆಂದರಿಯರು ಎಂತೆಂದರಿಯರು ಹೇಳಿರಯ್ಯಾ (ಹೇಳಯ್ಯಾ?)
ಕೃತಯುಗದಂದಿನ ಮಾತು ಬೇಡ
ಗುಹೇಶ್ವರ ಅಂದೂ ಇಲ್ಲ ಇಂದೂ ಇಲ್ಲ. ॥೪೫॥

೬೫೧

ಅರಸಲಿಲ್ಲದ ಘನವ ಅರಸುವದದೇನೊ? ತಿಳಿವುದದೇನೊ?
ತಿಳುಹಿನ ಮುಂದಣ ಸುಳುಹು ತಾನೇನೊ?
ಸರದ ಸಮತೆಯ ಪರಿಣಾಮವ ನೋಡಾ !
ಗುಹೇಶ್ವರನೆಂಬುದು ಅದೆ ಕಂಡಾ ! ॥೪೬॥

೬೫೨

ಉಪಮೆ ಉಪಮಿಸಲರಿಯದೆ ಉಪಮಾತೀತವೆನುತ್ತಿದ್ದಿತ್ತು.
ಅರಿವು, ಅರಿವಿನ ಮರೆಯಲ್ಲಿರ್ದುದನರಿಯಲರಿಯದೆ,
ಪರಾಪರವೆಂದು ನುಡಿಯುತ್ತಿದ್ದಿತ್ತು.
ಧ್ಯಾನ ಧ್ಯಾನಿಸಲರಿಯದೆ, ಧ್ಯಾನರೂಪಾತೀತನೆಂದು, ತದ್ಧ್ಯಾನಗೊಂಡಿತ್ತು.
ಜ್ಞಾತೃ ಜ್ಞಾನ ಜ್ಞೇಯಕ್ಕೆ ಇನ್ನಾವ ಜ್ಞಾನವೊ?
ವೇದವಿಜ್ಞಾನವೆಂದುದಾಗಿ, 'ತತ್ತ್ವಮಸಿ' ವಾಕ್ಯಂಗಳೆಲ್ಲವೂ
ಹುಸಿಯಾಗಿ ಹೋದವು.
ಸಚ್ಚಿದಾನಂದವೆಂದುದಾಗಿ
ದ್ವೈತಾದ್ವೈತಿಗಳೆಲ್ಲ ಸಂಹಾರವಾಗಿ ಹೋದರು.
ಬಂದೂ ಬಾರದ, ನಿಂದ ನಿರಾಳ ಗುಹೇಶ್ವರ. ॥೪೭॥

೬೫೩

ಯುಗಜುಗ ಮಡಿವಲ್ಲಿ ಬ್ರಹ್ಮಾಂಡಗಳಳಿವಲ್ಲಿ
ಲಿಂಗವೆಂದರಿತವರಾರೊ ?
ಶಿವ ಶಿವಾ ವಾಯದಲೊದಗಿದ ಮಾಯಾವಾದಿಗಳು !
ದೇವನೆಂದರಿತವರಾರೊ ?
ಶಿವ ಶಿವಾ ಅಗ್ನಿ ತೃಣದೊಳಗಡಗಿ ಲೀಯವಾದುದ
ಗುಹೇಶ್ವರಾ ನಿಮ್ಮ ಶರಣ ಬಲ್ಲ ! ॥೪೮॥

೬೫೪

ಕಾಲಚಕ್ರದ ವಚನ :

ಏಕಂ ಏಕವಾದ ವಸ್ತುವ ಲೋಕಾಲೋಕಂಗಳರಿಯವು
ಸ್ಥೂಲ ಸೂಕ್ಷ್ಮವೆನುತಿರ್ಪರೆಲ್ಲರೂ,
ಆತನೀತ ಬೇರೆ ಮತ್ತೊಬ್ಬಾತನೆಂಬ ಭ್ರಮೆಯಲ್ಲಿ
ಭೂತಪ್ರಾಣಿಗಳವರೆತ್ತ ಬಲ್ಲರು ಆತನ ಘನವ.
ಚಿಟುಕು ಮುನ್ನೂರರವತ್ತು ಕೂಡಿದಡೆ ಒಂದು ವಿಘಳಿಗೆ,
ಆ ವಿಘಳಿಗೆ ಅರುವತ್ತು ಕೂಡಿದೊಡೆ ಒಂದು ಘಳಿಗೆ,
ಆ ಘಳಿಗೆ ಅರುವತ್ತು ಕೂಡಿದೊಡೆ ಒಂದು ದಿನ.
ದಿನ ಮೂವತ್ತು ಕೂಡಿದೊಡೆ ಒಂದು ಮಾಸ
ಮಾಸ ಹನ್ನೆರಡು ಕೂಡಿದೊಡೆ ಒಂದು ವರುಷ
ವರುಷ ಅರುವತ್ತು ಕೂಡಿದೊಡೆ ಒಂದು ಸಂವತ್ಸರ–
ಇಂತೀ ಕಾಲಚಕ್ರಂಗಳು ಈ ಪರಿಧಿಯಲ್ಲಿ ತಿರುಗಿ ಬರುತ್ತಿಹವು ಕಾಣಿರೆ.
ನಾಲ್ಕು ಯುಗಂಗಳು ಬೇರೆ ಬೇರೆ ಕಟ್ಟಿದ ಕಟ್ಟಳೆಯೊಳು,
ತಿರುಗಿ ಬರುತ್ತಿಹವು ಕಾಣಿರೆ.
ಕೃತಯುಗ ಹದಿನೇಳು ಲಕ್ಷವು ಇಪ್ಪತ್ತೆಂಟುಸಾವಿರವರ್ಷ ವರ್ತಿಸಿ ನಿಂದಿತ್ತು.
ತ್ರೇತಾಯುಗ ಹನ್ನೆರಡು ಲಕ್ಷವು ತೊಂಬತ್ತಾರುಸಾವಿರ ವರ್ಷ ವರ್ತಿಸಿ ನಿಂದಿತ್ತು.
ದ್ವಾಪರಯುಗ ಎಂಟು ಲಕ್ಷವು ಅರುವತ್ತುನಾಲ್ಕುಸಾವಿರ ವರ್ಷ ವರ್ತಿಸಿ ನಿಂದಿತ್ತು.
ಕಲಿಯುಗ ನಾಲ್ಕುಲಕ್ಷವು ಮೂವತ್ತೆರಡುಸಾವಿರ ವರ್ಷ ವರ್ತಿಸಿ ನಿಂದಿತ್ತು.
–ಇಂತೀ ನಾಲ್ಕು ಯುಗಂಗಳು ಕೂಡಿ ಒಂದಾಗಿ ಮೇಳಯಿಸಿದೊಡೆ,
ನಾಲ್ವತ್ತು ಮೂರು ಲಕ್ಷವು ಇಪ್ಪತ್ತುಸಾವಿರ ವರುಷ ಕಟ್ಟಳೆಯಾಯಿತ್ತು.
ಈ ನಾಲ್ಕುಯುಗಂಗಳು ಇಪ್ಪತ್ತೊಂದು ಬಾರಿ ತಿರುಗಿದಡೆ
ಸುರಪತಿಗೆ ಪರಮಾಯು. ಬ್ರಹ್ಮಂಗೆ ಜಾವ,
ಅಷ್ಟಾಶಿತಿ ಸಹಸ್ರ ಋಷಿಯರು ಸಾವಿರಬಾರಿ ತಿರುಗಿದಡೆ
ಬ್ರಹ್ಮಂಗೆ ಆಯುಷ್ಯ ನೂರಪ್ಪುದು. ವಿಷ್ಣುವಿಂಗೆ ಜಾವಪ್ಪುದು.
ಆ ವಿಷ್ಣುವಿನ ಒಂದು ದಿನ(ಜಾವ?)ದೊಳಗೆ
ನಾಲ್ಕು ಬಾರಿ ಹುಟ್ಟಿ ನಾಲ್ಕು ಬಾರಿ ಹೊಂದುವ ಬ್ರಹ್ಮನು,
ಆ(ದಿ) ವಿಷ್ಣುವಿನ ಒಂದು ದಿನವಪ್ಪುದು. (ಅಂಥ ವಿಷ್ಣುವಿನ ಒಂದು ದಿನದಲ್ಲಿ)
ಸಮಸ್ತ ಈರೇಳು ಭುವನಂಗಳೆಲ್ಲ ಭೂತಸಂಹಾರ .
ಅಂಥಾ ಭೂತಸಂಹಾರಗಳು
ಹದಿನೆಂಟು ಲಕ್ಷವು ಇಪ್ಪತ್ತೆಂಟುಸಹಸ್ರ ವರುಷ ತಿರುಗಲು
ಪೃಥ್ವಿಯೆಲ್ಲಾ ಜಲಪ್ರಳಯ.
ಅಂಥಾ ಜಲಪ್ರಳಯವೆಂಟು ಬಾರಿ ತಿರುಗಿದಡೆ ವಿಷ್ಣುವಿಂಗೆ ಮರಣ.

ರುದ್ರಂಗೆ ನಿಮಿಷ.
ಅಂಥಾ ರುದ್ರನ ಒಂದು ನಿಮಿಷದಲ್ಲಿ
ಅತಳ ವಿತಳ ಸುತಳ ಮಹೀತಳ ರಸಾತಳ ತಳಾತಳ ಪಾತಾಳ–
ಇಂತು ಕೆಳಗೇಳು ಭುವನಂಗಳು,
ಮೇಲೆ, ಸತ್ಯಲೋಕ ಜನರ್ಲೋಕ ತಪೋಲೋಕ ಮಹರ್ಲೋಕ, ಸ್ವರ್ಲೋಕ
ಭುವರ್ಲೋಕ ಭೂಲೋಕ ಮೊದಲಾಗಿ – ಇಂತೀ ಲೋಕಾಲೋಕಂಗಳೆಲ್ಲ ಮುಳುಗಿ
ಮಹಾಪ್ರಳಯವಾದಲ್ಲಿ ರುದ್ರಲೋಕವೊಂದುಳಿಯೆ, ಆ ರುದ್ರಂಗೆ ಒಂದುದಿನ.
ಅಂಥಾದಿನ ಮುನ್ನೂರರವತ್ತು ಕೂಡಿದಡೆ ಒಂದು ವರುಷ.
ಅಂಥಾ ವರುಷ ಶತಕೋಟಿ ಕೂಡಿದಡೆ ರುದ್ರಂಗೆ ಪರಮಾಯು.
ಅಂಥಾ ರುದ್ರರು ಅನೇಕರು ಹೋದರಲ್ಲಾ,
ಮತ್ತಂ ಪಶುಪತಿ, ಶಂಕರ, ಶಶಿಧರ, ಸದಾಶಿವ, ಗೌರೀಪತಿ, ಮಹಾದೇವ
ಈಶ್ವರರೆಂಬವರು
ಆ ದಿನದಲ್ಲಿ ಇವರು ಪ್ರಮಥಗಣೇಶ್ವರರು, ತಪೋರಾಜ್ಯವನುಂಬರು.
ತಪಕ್ಕೆ ಬಿಜಯಂಗೈವರು ಆ ರುದ್ರರು.
ಲೋಕಾಲೋಕಂಗಳು ಕೂಡಿ ಭೂತ ವರ್ತಿಸುತ್ತಿದ್ದಿತ್ತೊಂದು ಕೆಲವು ಕಾಲ.
ಅದು ತೊಡೆದು ಹೋಯಿತ್ತು.
ಬಳಿಕ ಶೂನ್ಯವರ್ತಿಸುತ್ತಿದ್ದಿತ್ತೊಂದು ಕೆಲವು ಕಾಲ,
ಅದು ತೊಡೆದು ಹೋಯಿತ್ತು
ಬಳಿಕ ಕಾಳಾಂಧರ ವರ್ತಿಸುತ್ತಿದ್ದಿತ್ತೊಂದು ಕೆಲವು ಕಾಲ.
ಅದು ತೊಡೆದು ಹೋಯಿತ್ತು – ಬಳಿಕ ಮಹಾ ಪ್ರಕಾಶದ ಬೆಳಗು.
ಇಂತಹ ಕಾಲಂಗಳು ಈ ಪರಿಯಲ್ಲಿ ತಿರುಗಿ ಬರುತ್ತಿಹವು ಕಾಣಿರೆ !
ಅಂತಹ ಕಾಲಂಗಳೂ ಅರಿಯವು. ಅಂತಹ ದಿನಂಗಳೂ ಅರಿಯವು
ಅಂತಹ ದೇವತೆಗಳೂ ಅರಿಯರು, –
ಅಪ್ರಮಾಣ ಅಗಮ್ಯ ಅಗೋಚರ ಉಪಮಿಸಬಾರದು
ಅಂತಿಂತೆನಲಿಲ್ಲ ಗುಹೇಶ್ವರಲಿಂಗ ನಿರಂಜನ ನಿರಾಳ ! ನಿರಾಮಯ ! ॥೪೯॥

೭೫೫

ಹಿಂದೆ ಎಷ್ಟು ಪ್ರಳಯ ಹೋಯಿತ್ತೆಂದರಿಯೆ.
ಮುಂದೆ ಎಷ್ಟು ಪ್ರಳಯ ಬಂದಹುದೆಂದರಿಯೆ.
ತನ್ನ ಸ್ಥಿತಿಯ ತಾನರಿಯದಡೆ ಅದೇ ಪ್ರಳಯವಲ್ಲಾ !
ತನ್ನ ವಚನ ತನಗೆ ಹಗೆಯಾದಡೆ ಅದೇ ಪ್ರಳಯವಲ್ಲಾ !
ಇಂತಹ ಪ್ರಳಯ ನಿನ್ನಲುಂಟೆ ಗುಹೇಶ್ವರಾ ? ॥೫೦॥

೬೫೭

ಘನವ ಮನ ಕಂಡು ಆದನೊಂದು ಮಾತಿಂಗೆ ತಂದು ನುಡಿದಡೆ
ಅದಕ್ಕದೇ ಕಿರಿದು ನೋಡಾ.
ಅದೇನೂ ಇಲ್ಲದ ನಿಸ್ಸಂಗದ ಸುಖವು ಗುಹೇಶ್ವರ ! ॥೫೧॥

೬೫೭

ಸಚರಾಚರವೆಂಬುದೊಂದು ಕಿಂಚಿತ್ತು.
ಚತುರ್ಯುಗವೆಂಬುದೊಂದು ಕಿಂಚಿತ್ತು.
ಅಪ್ಪುದೆಂಬುದೊಂದು ಕಿಂಚಿತ್ತು, ಆಗದೆಂಬುದೊಂದು ಕಿಂಚಿತ್ತು.
ತಾನು ಶುದ್ಧವಾದ ಶರಣಂಗೆ
ಗುಹೇಶ್ವರನೆಂಬುದೊಂದು ಕಿಂಚಿತ್ತು. ॥೫೨॥

೬೫೮

ತಾ ಸುಖಿಯಾದಡೆ ನಡೆಯಲು ಬೇಡ.
ತಾ ಸುಖಿಯಾದಡೆ ನುಡಿಯಲು ಬೇಡ.
ತಾ ಸುಖಿಯಾದಡೆ ಪೂಜಿಸಲು ಬೇಡ,
[ತಾ ಸುಖಿಯಾದಡೆ ಉಣಲು ಬೇಡ] ಗುಹೇಶ್ವರಾ. ॥೫೩॥

೬೫೯

ನಾದ ಮುನ್ನವೊ ಬಿಂದು ಮುನ್ನವೊ ?
ಕಾಯ ಮುನ್ನವೊ ಜೀವ ಮುನ್ನವೊ ?
ಜೀವ ಕಾಯದ ಕುಳಸ್ಥಳಂಗಳ ಬಲ್ಲವರು ನೀವು ಹೇಳಿರೆ ?
ಗುಹೇಶ್ವರಾ ನೀನು ಮುನ್ನವೊ ನಾನು ಮುನ್ನವೊ ?
ಬಲ್ಲವರು ನೀವು ಹೇಳಿರೆ ? ॥೫೪॥

೬೬೦

ಅರಿವರಿತು ಬೆರಗು ಹತ್ತಿತೆಂಬ ಜ್ಞಾನವಿದೇನೊ ?
'ನಾಹಂ' ಎಂಬಲ್ಲಿ ತಾನಾರೊ ?
'ಕೋಽಹಂ' ಎಂಬಲ್ಲಿ ಮುನ್ನಾರೊ ?
'ಪರಬ್ರಹ್ಮ ಸೋಽಹಂ' ಎಂಬಲ್ಲಿ ಮುನ್ನ ತಾನೇನಾಗಿದ್ದನೊ ?
ಚಿದಹಂ ಎಂಬ ಹಮ್ಮಿನ ಮಾಲೆ ಇದೇನು ಹೇಳಾ ?

"ನಿಃಶಬ್ದಂ ಬ್ರಹ್ಮ ಉಚ್ಯತೇ" ಎಂಬ ಶಬ್ದವಿಡಿದು
ಬಳಲುವ ಕಾರಣವಿದೇನು ಹೇಳು ಗುಹೇಶ್ವರಾ ? ॥೫೫॥

೬೬೧

ವಸುಧೆಯಿಲ್ಲದ ಬೆಳಸು ರಾಜಾನ್ನ ಹೆಸರಿಲ್ಲದ ಓಗರ,
ವೃಷಭ ಮುಟ್ಟದ ಹಯನು,
ಬೆಣ್ಣೆಯ ಹೊಸೆವರಿಲ್ಲದೆ ಕಂಡುಂಡೆ.
ಶಿಶು ಕಂಡ ಕನಸಿನಂತೆ, ಗುಹೇಶ್ವರನೆಂಬುದು ಹೆಸರಿಲ್ಲದ ಬಯಲುಃ ! ॥ ೫೬ ॥

೬೬೨

ಧರೆಯಗಲದ ಹುಲ್ಲೆ ಹರಿದು ಮೇಯಿತ್ತ ಕಂಡೆ.
ಬಲೆಯ ಬೀಸುವ ಗಂಡರಾರೂ ಇಲ್ಲ,
ಹರಿದು ಹಿಡಿದಹೆನೆಂದಡೆ ತಲೆ ಕಾಣಬರುತ್ತಲಿದೆ.
ಶಿರವ ಹಿಡಿದೆಹೆನೆಂಬವರಿನ್ನಾರೂ ಇಲ್ಲ.
ಹರಿದಾಡುವ ಹುಲ್ಲೆಯ ಕಂಡು ಹಲವು ಬೇಳಾರ (ಬೆಳ್ಳಾರ?)ವ ಬಿಟ್ಟು,
ಬೇಟೆಕಾರ ಬಲೆಯ ಬೀಸಿದಡೆ ಹುಲ್ಲೆಯಂಜಿ ಹೋಯಿತ್ತು.
ಮರುಳುದಲೆಯಲ್ಲಿ ಹುಲ್ಲೆಯನೆಸೆದಯಬೇಕೆಂದು
ಸರಳ ಬಿಟ್ಟು ಬಾಣವನೊಂದು ಕೈಯಲ್ಲಿ ಹಿಡಿದು (ಹಿಡಿವಡೆ?)
ಹಳ್ಳಕೊಳ್ಳವ ದಾಂಟಿ ಗಟ್ಟಬೆಟ್ಟವ ಕಳೆದು
ಅತ್ತ ಬಯಲ ಮರನ ತಾ ಮೊರೆಗೊಂಡಿತ್ತು.
ಹತ್ತೆ ಸಾರಿದ ಮೃಗವ ತಾನೆಚ್ಚಡೆ
ನಾರಿ ಹರಿದು ಬಿಲ್ಲು ಮುರಿದು ಹುಲ್ಲೆ ಸತ್ತಿತ್ತು.
ಅದ ಕಿಚ್ಚಿಲ್ಲದ ನಾಡಿಗೊಯ್ದು ಸುಟ್ಟು ಬಾಣಸವ ಮಾಡಲು
ಸತ್ತ ಹುಲ್ಲೆ ಕರಗಿ ಶಬ (ಸಬ?) ಉಳಿಯಿತ್ತು.
ಗುಹೇಶ್ವರಾ ನಿಮ್ಮ ಶರಣ
ಕಟ್ಟದಿರ ಬಾಣಸದ ಮನೆಗೆ ಬಂದನು. ॥ ೫೭ ॥

೬೬೩

ಕಾಯದೊಳಗೆ ಕರುಳುಳ್ಳನ್ನಕ್ಕರ ಹಸಿವು ಮಾಣದು.
ಕಾಯದೊಳಗಣ ಕರುಳ ತೆಗೆದು ಕಂಗಳ ಮೇಲಿರಿಸಿ
ಇದನಡಿಗೆಯ ಮಾಡಿ ಗಡಣೆಸುತ್ತಿದ್ದೆ,
ಏನೆಂಬೆ ಗುಹೇಶ್ವರಾ ? ॥ ೫೮ ॥

೬೬೪

ಆರು ಬಣ್ಣದ ಮೃಗವು ತೋರಿಯಡಗಿತ್ತು.
ಬಯಲ ಮೂರು ಲೋಕದೊಳಗೆ ಸಾರಿ. ಹೆಜ್ಜೆಯ ನೋಡಿ
ತೊರೆಯ ಬೆಂಬಳಿವಿಡಿದು ತೋಹಿನಲ್ಲಿಗೆ ಬಂದಿತ್ತು, ಮೃಗವು.
"ಸೋऽಹಂ ಸೋऽಹಂ" ಎನ್ನುತ್ತಿದ್ದಿತ್ತು, ಇಹಪರವ ಮೀರಿ ನಿಂದಿತ್ತು.
ತೋರಲಿಲ್ಲದ ಬಿಲ್ಲು ಬೇರೆನಿಸದ ಬಾಣ,
ಅರುಹಿನ ಕೈಯಲ್ಲಿ ಕುರುಹ ಬಾಣಸವ ಮಾಡಿ
ತೆರಹಿಲ್ಲದ ಪಾದಕದಲ್ಲಿ (ಶಾಖದಲ್ಲಿ?) ಅಡಿಗೆಯ ಮಾಡಿದ ಬೋನವ
ಅರ್ಪಿತವ ಮಾಡಿದ ಪ್ರಸಾದದಿಂದ ಸುಖಿಯಾದೆ ಗುಹೇಶ್ವರಾ. ॥ ೫೯ ॥

೬೬೫

ನಿರಾಳವೆಂಬ ಶಿಶುವಿಂಗೆ ಪೃಥ್ವಿಯೆಂಬ ತೊಟ್ಟಿಲು,
ನಿಜೈಕ್ಯವೆಂಬ ತಾಯಿ ಬಂದು ಮೊಲೆಯ ಕೊಟ್ಟು ಬೆಣ್ಣೆಯನಿಕ್ಕಿ;
ವಾಯು ಬಂದು ತೊಟ್ಟಿಲ ತೂಗಿ ಜೋಗುಳವಾಡಿದಡೆ,
ಆಕಾಶ ಬಂದು ಶಿಶುವನೆತ್ತಿಕೊಂಡು ಬೆಳೆಯಿಸಿತ್ತಲ್ಲಾ !
ನಿರಾಳವೆಂಬ ಹಸಿವು-ತೃಷೆಯ ಶಿಶುವಿಂಗೆ ಬೇಕೆಂದು
ಮುಗ್ಧೆಯ ಬೆಸಗೊಳಲರಿಯರು ಮೂರುಲೋಕವು ಗುಹೇಶ್ವರಾ. ॥೬೦॥

೬೬೬

ಉಲಿವ ಮರದ ಪಕ್ಷಿಯಂತೆ, ದೆಸೆದೆಸೆಯನಾಲಿಸುತ್ತಿರ್ದೆ.
ಅರಿವರಿಲ್ಲ ಅರಿವರಿಲ್ಲ ಅರಿದು ಮರೆಯಿತ್ತಯ್ಯಾ.
ಮಡುವಿನೊಳಗೆ ಬಿದ್ದ ಆಲಿಕಲ್ಲಿನಂತೆ
ತನ್ನ ತಾನಿರ್ದನು ಗುಹೇಶ್ವರಯ್ಯನು. ॥೬೧॥

೬೬೭

ಮೂರರಲ್ಲಿ ಮುಟ್ಟಲಿಲ್ಲ, ಆರರಲ್ಲಿ ತೋರಲಿಲ್ಲ.
ಎಂಟರಲ್ಲಿ ಕಂಡುದಿಲ್ಲ ಒಂದರಲ್ಲಿ ನಿಂದುದಿಲ್ಲ.
ಏನೆಂದೆಂಬೆ ? ಎಂತೆಂದೆಂಬೆ ?
ಕಾಯದಲ್ಲಿ ಅಳಿದುದಿಲ್ಲ ಜೀವದಲ್ಲಿ ಉಳಿದುದಿಲ್ಲ.
ಗುಹೇಶ್ವರನೆಂಬ ಲಿಂಗವು ಶಬ್ದಕ್ಕೆ ಬಂದುದಿಲ್ಲ. ॥ ೬೨ ॥

೬೬೮

ವಾಯು ನಿದ್ರೆಗೆಯ್ದಡೆ ಆಕಾಶ ಜೋಗುಳವಾಡಿತ್ತು.
ಬಯಲು ಬಳಲಿದೆನೆಂದಡೆ ನಿರಾಳ ಮೊಲೆಗೊಟ್ಟಿತ್ತು.
ಆಕಾಶವಡಗಿತ್ತು ಜೋಗುಳ ನಿಂದಿತ್ತು
ಗುಹೇಶ್ವರನೈದಾನೆ ಇಲ್ಲದಂತೆ. ॥ ೬೩ ॥

೬೬೯

ಉಪಾಧಿಕ ಮನವು !
ಉಪಾಧಿಕರಹಿತನ ಮನ ನಿಂದಲ್ಲಿ ನಿವಾತವಾಗಿತ್ತು.
ಆನಂದದ ಭಾವವು !
ಬಿಂದು ತಾನುಳಿದು ನಿಂದಲ್ಲಿ ನಿವಾತವಾಯಿತ್ತು.
ಲಿಂಗೋದಯ ಪ್ರಜ್ವಲಿಸುತ್ತಿದೆ,
ಗುಹೇಶ್ವರಲಿಂಗವು ತಾನೆಯಾಗಿ ! ॥ ೬೪ ॥

೬೭೦

ಶಿಶು ತಾಯ ಮೊಲೆವಾಲನೊಸೆದುಂಡು ತೃಪ್ತನಾಗಿ
ಹೆಸರ ಬೆಸಗೊಂಬಡದು ಉಪಮೆಗೆ ಸಾಧ್ಯವಿಲ್ಲಯ್ಯಾ.
ಕಣ್ಣಾಲಿ ಕಪ್ಪ ನುಂಗಿ ಸಣ್ಣ ಬಣ್ಣಗಳುಡಿಗೆ[ಯ]
ಬಣ್ಣದೊಳಗಣ ಭ್ರಮೆ ಇನ್ನಾರಿಗಳವಡದು.
ಬಣ್ಣ ಸಮುಚ್ಚಯವಾಗಿ ಬಣ್ಣ ಬಗೆಯನೆ ನುಂಗಿ
ಗುಹೇಶ್ವರನೆಂಬ ನಿಲವ ನಿಜದ ನಿಷ್ಪತ್ತಿ ನುಂಗಿತ್ತು. ॥ ೬೫ ॥

೬೭೧

ಅಂಗೈಯೊಳಗಣ ನಾರಿವಾಳದ ಸಸಿ,
ಅಂಬರದೆರಳೆಯ ನುಂಗಿತ್ತಲ್ಲಯ್ಯಾ.
ಕಂಭದೊಳಗಣ ಮಾಣಿಕ್ಯದ ಬಿಂದು
ನವಕೋಟಿ ಬ್ರಹ್ಮರ ನುಂಗಿತ್ತಲ್ಲಯ್ಯಾ.
ಅಂಡಜವೆಂಬ ತತ್ತಿ, ಹಲವು ಪಕ್ಷಿಯ ನುಂಗಿ
ನಿರ್ವಯಲಾಗಿತ್ತು ಗುಹೇಶ್ವರಾ ! ॥ ೬೬ ॥

೬೭೨

ಮನದ ಕೊನೆಯ ಮೊನೆಯ ಮೇಲೆ ನೆನೆದ ನೆನಹು
ಜನನ ಮರಣವ ನಿಲಿಸಿತ್ತು.
ಜ್ಞಾನಜ್ಯೋತಿಯ ಉದಯ ಭಾನುಕೋಟಿಯ ಮೀರಿ,
ಸ್ವಾನುಭಾವದ ಉದಯ ಜ್ಞಾನಶೂನ್ಯದಲಡಗಿದ
ಘನವನೇನೆಂಬೆ ಗುಹೇಶ್ವರಾ ! ॥ ೬೭ ॥

೬೭೩

ಭಾವಕ್ಕೆ ಇಂಬಿಲ್ಲ ಶಬ್ದ ಮೀಸಲು ನೋಡಾ.
ನುಡಿಗೆ ಎಡೆಯಿಲ್ಲ ಎಡೆಗೆ ಕಡೆಯಿಲ್ಲ,
ಗುಹೇಶ್ವರನೆಂಬ ಶಬ್ದ ವೇದಿಸಲೊಡನೆ ! ॥ ೬೮ ॥

೬೭೪

ನೆನಹು ನೆನೆವ ಮನದಲ್ಲಿಲ್ಲ, ತನುವಿನಲ್ಲಿ ಆಸೆಯಿಲ್ಲ.
ನೆನೆವ ಮನವನತಿಗಳೆದ ಘನಕ್ಕೆ ಘನವೆಂತೆಂಬೆ ?
ತನ್ನಲ್ಲಿ ತಾನಾಯಿತ್ತು, ಭಿನ್ನವಿಲ್ಲದೆ ನಿಂದ ನಿಜವು.
ಅನಾಯಾಸದ ಅನುವ ಕಂಡು ಅನು ಬೆರಗಾದೆನಯ್ಯಾ.
ಎಂತಿದ್ದುದು ಅಂತೆ ಅದೆ ಚಿಂತೆಯಿಲ್ಲದನುಭಾವ ಗುಹೇಶ್ವರಾ. ॥೬೯॥

೬೭೫

ಬೆಳಗು ಕತ್ತಲೆಯ ನುಂಗಿ, ಒಳಗೆ ತಾನೊಬ್ಬನೆಯಾಗಿ
ಕಾಬ ಕತ್ತಲೆಯ ಕಳೆದುಳಿದು
ನಿಮಗೆ ಅನು ಗುರಿಯಾದೆ ಗುಹೇಶ್ವರಾ. ॥೭೦॥

೬೭೬

ಕೆಟ್ಟುದನರಸ ಹೋಗಿ ತಾನೆ ಕೆಟ್ಟಿತ್ತು.
ಹೇಳಲೆಂತೂ ಬಾರದು ಕೇಳಲೆಂತೂ ಬಾರದು.
ಎಂತಿರ್ದುದಂತೆ !
ಸಹಜ ಸ್ವಾನುಭಾವದ ಸಮ್ಯಕ್ ಜ್ಞಾನವ, ಅಜ್ಞಾನಿ ಬಲ್ಲನೆ
ಗುಹೇಶ್ವರಾ ? ॥೭೧॥

೬೭೭

ಜಗದಗಲದ ಗಗನದ ಆನೆ ಕನಸಿನಲ್ಲಿ ಬಂದು ಮೆಟ್ಟಿತ್ತ ಕಂಡೆ
ಅದೇನೆಂಬೆ ಹೇಳಾ ? ಮಹಾಘನವನದೆಂತೆಂಬೆ ಹೇಳಾ ?
ಗುಹೇಶ್ವರನೆಂಬ ಲಿಂಗವನರಿದು ಮರೆದಡೆ,
ಲೋಯಿಸರದ ಮೇಲೆ ಬಂಡಿ ಹರಿದಂತೆ ! ॥೭೨॥

೬೭೮

ಕಡಲ ಮೇಲಣ ಕಲ್ಲು, ಸಿಡಿಲು ಹೊಯ್ದ ಬಾವಿ !
ತಡದ ರಕ್ಕಸಿಯ ಮಗಳು ಅಡವಿಯಲ್ಲಿ ಮಡಿದಳು.
ತೊಡೆಯಬಾರದ ಲಿಪಿಯ ಬರೆಯಬಾರದು ನೋಡಾ !
ನಡುನೀರ ಜ್ಯೋತಿಯ ವಾಯುವ ಕೊನೆಯಲ್ಲಿ ನೋಡಾ !
ಮೊದಲಿಲ್ಲದ ನಿಜ, ಕಡೆಯಿಲ್ಲದ ನಡು–
ಏನೂ ಇಲ್ಲದ ಊರೊಳಗೆ ಹಿಡಿದಡೆ
ನುಂಗಿತ್ತು ನೋಡಾ ಹೆಮ್ಮಾರಿ ಗುಹೇಶ್ವರಾ. ॥೭೩॥

೬೭೯

ತುಂಬಿ ಪರಿಮಳವನುಂಡಿತೊ, ಪರಿಮಳ ತುಂಬಿಯ ನುಂಡಿತೊ ?
ಲಿಂಗ ಪ್ರಾಣವಾಯಿತೊ ? ಪ್ರಾಣ ಲಿಂಗವಾಯಿತೊ ?
ಗುಹೇಶ್ವರಾ, ಇವರ ಈ ಉಭಯದ ಭೇದವ ನೀನೆ ಬಲ್ಲೆ. ॥೭೪॥

೬೮೦

ಬೆಣ್ಣೆಯ ಕಂದಲ ಕರಗಲಿಟ್ಟಡೆ
ಕಂದಲು ಕರಗಿತ್ತು ಬೆಣ್ಣೆ ಉಳಿಯಿತ್ತು !
ತುಂಬಿ ಇದ್ದಿತ್ತು ಪರಿಮಳವಿಲ್ಲ, ಪರಿಮಳವಿದ್ದಿತ್ತು ತುಂಬಿಯಿಲ್ಲ.
ತಾನಿದ್ದನು ತನ್ನ ಸ್ವರೂಪವಿಲ್ಲ; ಗುಹೇಶ್ವರನಿದ್ದನು ಲಿಂಗವಿಲ್ಲ ! ॥೭೫॥

೬೮೧

ಎಂಬತ್ತುನಾಲ್ಕು ಲಕ್ಷ ಒಟ್ಟೆ ಮೂರು ತತ್ತಿಯನಿಕ್ಕಿತ್ತ ಕಂಡೆ.
ಆನೆ ಆಡ ಹೋದಡೆ ಒಂದು ಚಿಕ್ಕಾಡು ನುಂಗಿತ್ತ ಕಂಡೆ,
ನಾರಿಯಾಡ ಹೋದಡೆ ಒಂದು ಚಂದ್ರಮತಿಯ ಕಂಡೆನು.
ಪೃಥ್ವೀಮಂಡಲವನೊಂದು ನೊಣ ನುಂಗಿತ್ತ ಕಂಡೆನು.
ಗುಹೇಶ್ವರನೆಂಬ ಲಿಂಗವ ಕಂಡವರುಳ್ಳಡೆ ನೀವು ಹೇಳಿರೆ. ॥೭೬॥

೬೮೨

ತೆರಹಿಲ್ಲದ ಘನ ಕುರುಹಿಂಗೆ ಬಾರದ ಮುನ್ನ
ತೋರಿದವರಾರು ಹೇಳಾ ಮಹಾ ಘನ ಲಿಂಗೈಕ್ಯವನು ?
ಆರೂಢದ ಕೂಟದಲ್ಲಿ ನಾನಾರುವ ಸಾಕ್ಷಿಯ ಕಾಣೆನು.
ಬೇರೆ ಮಾಡಿ ನುಡಿಯಬಹುದೆ ಪ್ರಾಣಲಿಂಗವನು ?
ಅರಿವು ಸ್ವಯವಾಗಿ ಮರಹು ನಷ್ಟವಾದಲ್ಲಿ
ಗುಹೇಶ್ವರಾ ನಿಮ್ಮ ಶರಣನುಪಮಾತೀತನು. ॥೭೭॥

೬೮೩

ಕರ್ಪುರದ ಗಿರಿಯ ಉರಿ ಹಿಡಿದಡೆ ಇದ್ದಿಲುಂಟೆ ?
ಮಂಜಿನ ಶಿವಾಲಯಕ್ಕೆ ಬಿಸಿಲ ಕಳಸವುಂಟೆ ?
ಕೆಂಡದ ಗಿರಿಯನರಗಿನ ಬಾಣದಲೆಚ್ಚಡೆ,
ಮರಳಿ ಬಾಣವನರಸಲುಂಟೆ ?
ಗುಹೇಶ್ವರನೆಂಬ ಲಿಂಗವನರಿದು
ಮರಳಿ ನೆನೆಯಲುಂಟೆ ? ॥೭೮॥

೬೮೪

ಸೊಪ್ಪಡಗಿದ ಸುಷ್ಮಾನಿಗಳವರಲ್ಲಿ ಗತಿಯನರಸುವರೆ ?
ಅವರಲ್ಲಿ ಮತಿಯನರಸುವರೆ ?
ಅಂಗವೆಲ್ಲ ನಷ್ಟವಾಗಿ ಲಿಂಗಲೀಯವಾದವರಲ್ಲಿ ಗತಿಯನರಸುವರೆ ?
ಅವರಲ್ಲಿ ಮತಿಯನರಸುವರೆ ? – ಗುಹೇಶ್ವರನೆಂಬ ನಿಜ ನಿಂದವರಲ್ಲಿ ? ॥೭೯॥

೬೮೫

ಅಟ್ಟಿ ಮುಟ್ಟಲಿಲ್ಲ, ಮುಟ್ಟಿ ಮರಳಲಿಲ್ಲ,
ಏನೆಂಬೆ ಲಿಂಗವೆ, ಎಂತೆಂಬೆ ಲಿಂಗಯ್ಯಾ ?
ನಿಜವನರಿದ ಬಳಿಕ ಮರಳಿ ಹುಟ್ಟಲಿಲ್ಲ, ಕಾಣಾ ಗುಹೇಶ್ವರಾ. ॥೮೦॥

೬೮೬

ಸತ್ಯವನೊಳಕೊಂಡ ಮಿಥ್ಯಕ್ಕೆ ಭಂಗ,
ಮಿಥ್ಯವನೊಳಕೊಂಡ ಸತ್ಯಕ್ಕೆ ಭಂಗ.
ಸತ್ಯ ಮಿಥ್ಯವನೊಳಕೊಂಡ ಮನಕ್ಕೆ ಭಂಗ !

ಮನವನೊಳಕೊಂಡ ಜ್ಞಾನಕ್ಕೆ ಭಂಗ;
ಜ್ಞಾನವನೊಳಕೊಂಡ ನಿಜಕ್ಕೆ ಭಂಗವುಂಟೆ ಗುಹೇಶ್ವರಾ ? ॥೮೧॥

೬೮೭

ತನುವಿಲ್ಲದೆ ಕಂಡು ಕಂಡು ನಿಂದೆ.
ಬೆರಗಿಲ್ಲದೆ ಕಂಡು ಕಂಡು ಬೆರಗಾದೆ.
ರೂಹಿಲ್ಲದೆ ಕಂಡರಿದೆ ಗುಹೇಶ್ವರನೆಂಬ ಲಿಂಗವ ! ॥೮೨॥

೬೮೮

ಘನವ ಕಂಡು ಮನ ಅವಗ್ರಾಹಕವಾಯಿತ್ತು.
ಕಂಡು ಕಂಡು ಮನ ಮಹಾಘನವಾಯಿತ್ತು,
ತಲ್ಲೀಯವಾಯಿತ್ತು !— ತದುಗತ ಶಬ್ದ ಮುಗ್ಧವಾದುದನೇನೆಂಬೆ
ಗುಹೇಶ್ವರಾ ? ॥೮೩॥

೬೮೯

'ನಾ' 'ನೀ' ಎಂಬ ಭೇದ ಅಂದೂ ಇಲ್ಲ, ಇಂದೂ ಇಲ್ಲ
ಸಾಲೋಕ್ಯನಲ್ಲ ಸಾಮೀಪ್ಯನಲ್ಲ ಶರಣ.
ಸಾರೂಪ್ಯನಲ್ಲ ಸಾಯುಜ್ಯನಲ್ಲ ಶರಣ.
ಕಾಯನಲ್ಲ ಅಕಾಯನಲ್ಲ
ಗುಹೇಶ್ವರಲಿಂಗ ತಾನೆಯಾಗಿ. ॥೮೪॥

೬೯೦

ಕರಿಯ ಮುತ್ತಿನ ಹಾರದ ಪರಿಯೊಂದು ಶೃಂಗಾರ,
ಕರದ ಬಣ್ಣದ ನುಡಿಯ ಬೆಡಗಿನೊಳಗಡಗಿತ್ತು.
ಸಿಡಿಲ ಬಣ್ಣವನುಟ್ಟು ಮಡದಿ ಒಂದೂರೊಳಗೆ
ಕಡುಗಲಿಯ ವಿದ್ಯೆಯನು ನೋಡಿ,
ನೋಡದ ನಿರ್ಭಾವ ವೀರವಿತರಣೆಯಿಂದ,
ಧಾರುಣಿಯ ರಚನೆಯ, ಗುಹೇಶ್ವರನೆಂಬ ಲಿಂಗವ
ಬೆಡಗು ನುಂಗಿ ಅಡಗಿತ್ತು. ॥೮೫॥

೬೯೧

ನುಡಿಯಿಂದ ನಡೆಗೆಟ್ಟಿತ್ತು ನಡೆಯಿಂದ ನುಡಿಗೆಟ್ಟಿತ್ತು.
ಭಾವದ ಗುಸುಟು ಅದು ತಾನೆ ನಾಚಿ ನಿಂದಿತ್ತು.
ಗುಹೇಶ್ವರನೆಂಬ ಅರಿವು ಸಿನೆ ಬಂಜೆಯಾಯಿತ್ತು. ॥೮೬॥

೬೯೨

ನಿರ್ವಿಕಲ್ಪಿತವೆಂಬ ನಜದೊಳಗಯ್ಯಾ,
ನಿರಹಂಭಾವದಲ್ಲಿ ನಾನಿದ್ದೆನಯ್ಯಾ (ನೀ ನಿದ್ದೆಯಯ್ಯಾ ?)
ನೋಡಿಹೆನೆಂದಡೆ ನೋಡಲಿಲ್ಲ, ಕೇಳಿಹೆನೆಂದಡೆ ಕೇಳಲಿಲ್ಲ.
ಘನನಿರಂಜನದ ಬೆಳಗಿಂಬಾದುದನೇನೆಂಬೆ ಗುಹೇಶ್ವರಾ ? ॥೮೭॥

೬೯೩

ಅಂಗದೊಳಗಣ ಸವಿ, ಸಂಗದೊಳಗಣ ರುಚಿ,
ಅಂಗನೆಯ ನಖದೊಳಗೆ ಬಂದು ಮೂರ್ತಿಯಾಯಿತ್ತು !
ಚಂದ್ರಕಾಂತದ ಗಿರಿಗೆ ಬಿಂದುತೃಪ್ತಿಯ ಸಂಚ !
ಅದರಂದದೊಳಗಣ ಭ್ರಮೆಯ ಪಿಂಡದಾಹುತಿ ನುಂಗಿತ್ತು.
ಚಂದ್ರಮನ ಷೋಡಶಕಳೆಯ ಇಂದ್ರನ ವಾಹನ ನುಂಗಿ,
ಗುಹೇಶ್ವರನೆಂಬ ನಿಲವ ನಖದ ಮುಖ ನುಂಗಿತ್ತು ! ॥೮೮॥

೬೯೪

ಬಯಲ ಬೆರಗಿನ ಸುಖದ ಸವಿಯ ಬೆರಗಲ್ಲದೆ ಕಾಣೆ !
ಕಾಣೆನೆಂಬ ನುಡಿಗೆಡೆಯ ಕಾಣೆ !
ಕುರುಹುಗೆಟ್ಟು ಅರಿವ ನೆರೆಯರಿದು
ಬೆರಸಿದೆನೆಂಬ ಬರುನುಡಿಯ ನುಡಿಗೆ
ನಾಚಿದೆನಯ್ಯಾ ಗುಹೇಶ್ವರಾ. ॥೮೯॥

ಗದ್ಯ: ಸ್ವಸ್ತಿ ಸಮಸ್ತಭುವನಜನದ ತಿಮಿರಹರಣ ಕಾರಣಸ್ವರೂಪರುಂ, ಭಕ್ತಿ ದೇಹಿಕದೇವರುಂ, ಭಕ್ತವತ್ಸಲರುಂ ಸರ್ವಾಂಗಪ್ರಾಣಲಿಂಗಮೂರ್ತಿ ವಿಲಾಸರುಂ, ಪುಲಿಗೆರೆಯ ಪುರವರಾಧೀಶ್ವರರುಂ ಅಪೂರ್ವ ಸ್ವಯಂಭು ಚೆನ್ನದಕ್ಷಿಣ ಶ್ರೀ ಸೋಮನಾಥದೇವರ ದಿವ್ಯವಾದ ಪದ್ಮಾರಾಧಕರುಂ ತ್ರಿಕಾಂಡನಿಷ್ಠರುಂ ಋಗ್ಯಜುಸ್ಸಾಮಾಥ–

ವರ್ಣಾಂತರ್ಗತ ಪ್ರತಿಪಾದ್ಯ ಪ್ರಮುಖರುಂ ಶ್ರುತಿ ಸ್ಮೃತಿ ಪುರಾಣಾಗಮೇತಿಹಾಸಾದಿ ನಾನಾ ಶಾಸ್ತ್ರಕೋವಿದರುಂ ಪರಮವೀರಶೈವಾಗಮಾರ್ಚಾರ್ಯರುಂ ಸಕಲ ಪ್ರಸಾದ ಪಂಚಾಕ್ಷರೀಮಂತ್ರಸಿದ್ಧರುಂ, ನಿತ್ಯ ಪರಿಪೂರ್ಣ ಸಚ್ಚಿದಾನಂದ ನಿರಂಜನ ಪರಂಜ್ಯೋತಿ ಸ್ವರೂಪರುಮಪ್ಪ ಮಹಾಲಿಂಗದೇವರು ತಮ್ಮ ದಿವ್ಯಜ್ಞಾನಾನಂದಸಿದ್ಧವರಪ್ರಸನ್ನ ಪ್ರಸಾದವನು ನಿಜ ಸತ್‌ಶಿಷ್ಯ ಭಕ್ತಿಭಾಂಡಾರಿ ಜಕ್ಕಣ್ಣಾಚಾರ್ಯಂಗೆ ಸತ್ಪ್ರೇಮ ಮಹಾನುಭಾವ ಸಂಭೋಧೆ ಸಂಬಂಧ ನಿರೂಪಣಕಾರಣಾರ್ಥಂ ವಿರಚಿತಮಪ್ಪ ಪ್ರಭುದೇವರ ಷಡುಸ್ಥಲದೊಳು ಐಕ್ಯವರ್ಗಂ ಷಷ್ಠಮ ಪರಿಚ್ಛೇದಃ.



೬೯೫

ಅಂಗ ಅಂಗನೆಯ ರೂಪಲ್ಲದೆ,
ಮನ ವಸ್ತುಭಾವದಲ್ಲಿ ಬೆಚ್ಚಂತಿಪ್ಪುದು.
ಬಂದ ಕಥನದಲ್ಲಿ ಬಂದು ಹಿಂಗಿದೆಯಲ್ಲಾ ಅಕ್ಕಾ !
ಗುಹೇಶ್ವರಲಿಂಗದಲ್ಲಿ ಉಭಯನಾಮವಳಿದೆ ಎನ್ನಕ್ಕಾ. ॥೧॥

೬೯೬

ಅಂಗ ಅನಂಗವೆಂಬೆರಡೂ ಅಳಿದು ನಿಜದಲ್ಲಿ ನಿಂದ ಲಿಂಗೈಕ್ಯನ
ಅಂಗದಲುಳ್ಳ ಕ್ರೀಗಳೆಲ್ಲವೂ ಲಿಂಗಕ್ರೀಗಳು ನೋಡಾ.
ಮನೋಲಯವಾಗಿಪ್ಪ ಲಿಂಗೈಕ್ಯನ ಅನುಭಾವವೆಲ್ಲವೂ
ಜ್ಞಾನನಷ್ಟ ಶಬ್ದ ನೋಡಾ.
ತನ್ನಲ್ಲಿ ತಾನು ತದ್ಗತವಾಗಿಪ್ಪ ಶಿವಯೋಗಿಗೆ
ಭಿನ್ನವಿಲ್ಲ ನೋಡಾ– ಗುಹೇಶ್ವರ ಸಾಕ್ಷಿಯಾಗಿ. ॥೨॥

೬೯೭

ಅಂಗ ಉಳ್ಳನ್ನಬರ ಲಿಂಗಪೂಜೆಯ ಬೇಕು.
ಲಿಂಗವೆಂಬ ಮೂರ್ತಿ ಉಳ್ಳನ್ನಬರ ಸಂದಿಲ್ಲದೆ ಅರ್ಪಿಸಬೇಕು.
ಅಂಗವಳಿದ ಮತ್ತೆ ಲಿಂಗವೆಂಬ ಭಾವ ಹಿಂಗದಿರಬೇಕು.
ಅದು ಗುಹೇಶ್ವರಲಿಂಗದ ಇರವು ಚಂದಯ್ಯಾ. ॥೩॥

೬೯೮

ಅಂಗಕ್ಕೆ ಆಚಾರವಾಗಿ ಕಳೆಗಳುಳ್ಳನ್ನಕ್ಕ
ಸಕಲ ಪದಾರ್ಥವ ಲಿಂಗಕ್ಕೆ ಕೊಟ್ಟಲ್ಲದೆ ಕೊಳಲಾಗದು.
ಲಿಂಗವ ಬಿಟ್ಟು ಕಳೆ ಹಿಂಗಿದ ಬಳಿಕ ಅಂಗವೇನು ಬಲ್ಲುದೊ ?
ಕಪ್ಪಡಿಯ ಸಂಗಮನಾಥನಲ್ಲಿ ಐಕ್ಯವಾದಂದಿಂಗೆ ನಿಜವ ಮರೆ.
ಗುಹೇಶ್ವರಲಿಂಗ ಸಾಕ್ಷಿಯಾಗಿ,
ಸಂಗನಬಸವಣ್ಣಾ ಅರ್ಪಿತವಿಲ್ಲದೆ ಕೊಳದಿರು ಅನರ್ಪಿತವ. ॥೪॥

೬೯೯

ಅಂಗಕ್ಕೆಂದಡೆ ಹಿರಿಯ ಹರಿವಾಣವ ತುಂಬಿ ಬೋನವ ತಾ ಎಂಬರು.
ಲಿಂಗಕ್ಕೆಂದಡೆ ಚಿಕ್ಕ ಗಿಣ್ಣಿಲು ತುಂಬಿ ಬೋನವ ತಾ ಎಂಬರು.

ಅಂಗವ ಹಿರಿದು ಮಾಡಿ ಲಿಂಗವ ಕಿರಿದು ಮಾಡಿ
ಮನೆಯಲ್ಲಿ ಮಡಕೆ ತುಂಬಿ ಬೋನವ ಮಾಡಿ,
ಚಿಕ್ಕ ಕುಡಿಕೆ ಗಿಣ್ಣಲು ಲಿಂಗಕ್ಕೆ ಬೋನವ ಹಿಡಿವ
ಈ ಮಡಕೆಮಾರಿಗಳನೇನೆಂಬೆ ಗುಹೇಶ್ವರಾ. ॥೫॥

೭೦೦

ಅಂಗಜಂಗುಳಿಗಳೆಲ್ಲಾ ಅಶನಕ್ಕೆ ನೆರೆದರು.
ಲಿಂಗದ ಹವಣನಿವರೆತ್ತ ಬಲ್ಲರು ?
ಕಾಯಜೀವಿಗಳು ಕಳವಳಧಾರಿಗಳು,
ದೇವರ ಸುದ್ದಿಯನಿವರೆತ್ತ ಬಲ್ಲರು ?
ಮದ್ಯಪಾನವನುಂಡು ಮದವೆದ್ದ ಜೋಗಿಯಂತೆ ನುಡಿವರು.
ಗುಹೇಶ್ವರನ ನಿಲವನಿವರೆತ್ತ ಬಲ್ಲರು. ॥೬॥

೭೦೧

ಅಂಗದ ಕಳೆ ಲಿಂಗದಲ್ಲಿ ಅರತ ಬಳಿಕ,
ಅಂಗವೆಂಬ ಶಂಕೆಯಿಲ್ಲ ನೋಡಾ ಶರಣಂಗೆ.
ಪ್ರಾಣದ ಕಳೆ ಅರಿವಿನಲ್ಲಿ ಅರತ ಬಳಿಕ,
ಶಬ್ದಸಂದಣಿಗೆ ಹಂಗಿಲ್ಲ ನೋಡಾ.
ಶರಣ ನಡೆದಡೆ ನಿರ್ಗಮನಿ ನುಡಿದಡೆ ನಿಶ್ಶಬ್ದಿ !
ಗುಹೇಶ್ವರನ ಶರಣಂಗೆ ಕುರುಹಿಲ್ಲ ಕೇಳಾ ಎಲೆ ಅವ್ವಾ. ॥೭॥

೭೦೨

ಅಂಗದ ಕೈಯಲ್ಲಿ ಲಿಂಗ, ಮನದ ಕೈಯಲ್ಲಿ ಸಂಸಾರ,
ಎಂತಯ್ಯಾ ನಿನ್ನ ಪ್ರಾಣಲಿಂಗವೆಂಬೆ ?
ಹೊರಗೆ ಕುರುಹಾಗಿ ತೋರುತ್ತಿದೆ.
ತನುವಿಗೆ ತನು ಸಯವಾಗದು ಮನಕ್ಕೆ ಮನ ಸಯವಾಗದು
ಎಂತಯ್ಯಾ ನಿನ್ನ ಪ್ರಾಣಲಿಂಗವೆಂಬೆ ಗುಹೇಶ್ವರಾ. ॥೮॥

೭೦೩

ಅಂಗದ ಮೇಲಣ ಲಿಂಗವ ಹಿಂಗಿದಾತನ ಭವಿಯೆಂಬರು,
ಅಂಗದ ಮೇಲಣ ಲಿಂಗವು ಇಪ್ಪಾತನ ಭಕ್ತನೆಂಬರು,
ಅಂಗದೊಳಗೆ ಬೆರಸಿಪ್ಪ ಲಿಂಗದ ಹೊಲಬನರಿಯದೆ.

ಲಿಂಗವಿಲ್ಲದೆ ಒಂದು ಕ್ಷಣ ಒಂದಂಗ ಸುಳಿದುದುಂಟೆ ಜಗದೊಳಗೆ ?
ಅಂಗದೊಳಗಣ ಲಿಂಗವನು ಹಿಂಗಿದವರಿಗೆ
ಭವಮಾಲೆಯುಂಟು,
ಹಿಂಗದವರಿಗೆ ಭವಮಾಲೆಯಿಲ್ಲ ಗುಹೇಶ್ವರಾ. ॥೯॥

೭೦೪

ಅಂಗದ ಮೇಲಣ ಲಿಂಗವ ಹಿಂಗಿ ಸ್ಥಾವರಲಿಂಗಕ್ಕೆರಗುವ
ಭಂಗಿತರ ಮುಖವ ನೋಡಲಾಗದು.
ಅದೆಂತೆಂದಡೆ;
ತನ್ನ ಗಂಡನ ಬಿಟ್ಟು ಅನ್ಯ ಗಂಡರಿಗೆರಗುವ
ಹಾದರಗಿತ್ತಿಯಂತೆ ಅವಂದಿರ ಭಕ್ತಿ.
ಅಂತಪ್ಪ ಪಂಚಮಹಾಪಾತಕರ
ಮುಖದತ್ತ ತೋರದಿರಾ ಗುಹೇಶ್ವರಾ. ॥೧೦॥

೭೦೫

ಅಂಗದಲಪ್ಪಿದೆನೆಂದಡೆ ಸಿಲುಕದು,
ಪ್ರಾಣದಲಪ್ಪಿದೆನೆಂದಡೆ ಸಿಲುಕದು,
ಭಾವದಲಪ್ಪಿದೆನೆಂದಡೆ ಸಿಲುಕದು,
ಸೂಕ್ಷ್ಮತನುವಿನ ಮನದ ಕೊನೆಯ ಮೇಲೆ
ಅಪ್ಪಿದೆನೆಂದಡೆ ಸಿಲುಕದು.
ಭಾವಾತೀತವಾದ ನಿರಾಕಾರದ ಘನವು
ಸುಜ್ಞಾನದ ಮುಖಕ್ಕೆ ಅಸಾಧ್ಯ ನೋಡಾ !
ಗುಹೇಶ್ವರನ ಶರಣರನಿನ್ನಾವ ಪರಿಯಲ್ಲಿ
ತಡೆದು ನಿಲ್ಲಿಸುವೆ ಹೇಳಾ– ಸಿದ್ಧರಾಮಯ್ಯಾ ? ॥೧೧॥

೭೦೬

ಅಂಗದಲಳವಟ್ಟ ಲಿಂಗೈಕ್ಯನ ಸಂಗವನಾರಿಗೂ ಕಾಣಬಾರದು ನೋಡಾ.
ಪ್ರಾಣದ ಕೊನೆಯ ಮೊನೆಯ ಮೇಲೆ, ಭಾವಸೂತಕದ ಹೊದಕೆಯ ಕಳೆದು,
ನಿರ್ಭಾವ ನಿಸ್ಸೂತಕಿಯಾಗಿಪ್ಪ ನಿಜಲಿಂಗ ಸಮಾಧಿಯ ಘನವನು
ಆರಿಗೆಯೂ ಕಾಣಬಾರದು ನೋಡಾ.
ಗುಹೇಶ್ವರಲಿಂಗದಲ್ಲಿ ಸಂಗನಬಸವಣ್ಣನ ನಿಲವ ಕಂಡು
ನಾನು ಬದುಕಿದೆನು ಕಾಣಾ ಚೆನ್ನಬಸವಣ್ಣಾ. ॥೧೨॥

೭೦೭

ಅಂಗದ ಲಿಂಗವೆ ಮನದ ಲಿಂಗ, ಮನದ ಲಿಂಗವೆ ಭಾವದ ಲಿಂಗ,
ಭಾವದ ಲಿಂಗವೆ ಜಂಗಮದಾಸೋಹ,
ದಾಸೋಹವೆಂಬುದು ಸಂದಿಲ್ಲದ ನಿಜ ನೋಡಾ.
ಅದರಂದವನೆ ತಿಳಿದು ನಿಂದ ನಿಲುಕಡೆಯ ಭೇದವ
ಕೇಳಬೇಕೆಂದು ಬಂದಲ್ಲಿಯೆ ತಿಳುಹಬೇಕಯ್ಯಾ.
ಇಂತೀ ಪ್ರಕಾರದಲ್ಲಿ ಸಂದ ಸೌಖ್ಯದ ಭೇದವನು,
ಸಂದಿಲ್ಲದ ಲಿಂಗದ ನಿಜವನು,
ಇಂದು ನಮ್ಮ ಗುಹೇಶ್ವರಲಿಂಗದಲ್ಲಿ
ಚಂದಯ್ಯಂಗೆ ತಿಳುಹಿ ಕೊಡಾ ಚೆನ್ನಬಸವಣ್ಣಾ. ॥೧೩॥

೭೦೮

ಅಂಗದಲ್ಲಿ ಆಳವಟ್ಟಿಪ್ಪ ಆಚಾರವೆ ಲಿಂಗವೆಂದರಿದನು,
ಮನದಲ್ಲಿ ಬೆಳಗುತ್ತಿಪ್ಪ ಅರಿವೆ ಜಂಗಮವೆಂದರಿದನು,
ಈ ಎರಡರ ಸಂಗವೆ ತಾನೆಂದರಿದನು
ಮಾಡುವ ದಾಸೋಹವೆ ಲಿಂಗಜಂಗಮವೆಂದರಿದನು
ನಮ್ಮ ಗುಹೇಶ್ವರಲಿಂಗದಲ್ಲಿ,
ಸಂಗನಬಸವಣ್ಣನ ನಿಲವನರಿಯಬೇಕು ಕೇಳಾ ಚಂದಯ್ಯಾ. ॥೧೪॥

೭೦೯

ಅಂಗದಲ್ಲಿ ಆಚಾರವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ಆಚಾರದಲ್ಲಿ ಪ್ರಾಣವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ಪ್ರಾಣದಲ್ಲಿ ಲಿಂಗವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ಲಿಂಗದಲ್ಲಿ ಜಂಗಮವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ಜಂಗಮದಲ್ಲಿ ಪ್ರಸಾದವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ಪ್ರಸಾದದಲ್ಲಿ ನಿತ್ಯವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ನಿತ್ಯದಲ್ಲಿ ದಾಸೋಹವ ಸ್ವಾಯತವ ಮಾಡಿಕೊಂಡನಯ್ಯಾ ಬಸವಣ್ಣನು.
ದಾಸೋಹದಲ್ಲಿ ತನ್ನ ಮರೆದು,
ನಿಶ್ಚಿಂತನಿವಾಸಿಯಾಗಿ ಐದಾನೆ ಗುಹೇಶ್ವರಲಿಂಗದಲ್ಲಿ.
ಸಂಗನಬಸವಣ್ಣನ ಶ್ರೀಪಾದಕ್ಕೆ ಶರಣೆಂದು
ಧನ್ಯರಾಗಬೇಕು ನಡೆಯಾ– ಸಿದ್ಧರಾಮಯ್ಯಾ ॥೧೫॥

೭೧೦

ಅಂಗದೊಳಗಣ ಲಿಂಗ, ಲಿಂಗದೊಳಗಣ ಅಂಗ;
ಅಂಗ-ಲಿಂಗ ಸಂಗ ಹಿಂಗದಂತೆ ಮಾಡಿರೆ.
ದೇವ ದೇವ ಎಂಬಿರಿ ಬಲ್ಲವರು,
ಲಿಂಗವ, ಬಲ್ಲವರು ಹಿಡಿದುಕೊಳ್ಳಿರೆ !
ತಾ ಸತ್ತು ಲಿಂಗವ ಕೂಡಿಹೆನೆಂದಡೆ
ಗುಹೇಶ್ವರಂಗೆ ಬೇರೊಂದು ಠಾವುಂಟೆ ಹೇಳಿರೆ ? ॥೧೬॥

೭೧೧

ಅಂಗದೊಳಗೆ ಮಹಾಲಿಂಗವಿರಲು,
ಕೈಯ ಲಿಂಗ ಬಿದ್ದಿತ್ತೆಂದು ನೆಲದೊಳಗಂಗವ ಹೂಳಿ
ಭಂಗಪಡುವರಲ್ಲಾ,
ಗುಹೇಶ್ವರಲಿಂಗವನರಿಯದ ಜಡರು. ॥೧೭॥

೭೧೨

ಅಂಗದೊಳಗೆ ಲಿಂಗ ಲಿಂಗದೊಳಗೆ ಅಂಗ !
ಅಂಗವಿಲ್ಲದೆ ಬೇರೆ ಸಂಗವಿಲ್ಲ ಕಾಣಿರೆ.
ಅದೆಂತೆಂದಡೆ:
"ಲಿಂಗಸ್ಥಲಂ ಶಿವಃ ಸಾಕ್ಷಾತ್ ಜೀವಾತ್ಮಾಂಗಸ್ಥಲಂ ಭವೇತ್ ।
ಲಿಂಗಾಂಗಸ್ಥಲಯೋರೈಕ್ಯಂ ಶಿವಜೀವೈಕ್ಯಮೇವಹಿ ॥" ಎಂದುದಾಗಿ.
ಲಿಂಗವಿದ್ದೆಡೆಯ ನೀವು ತಿಳಿದು ನೋಡಿ ಕೂಡಿಕೊಳ್ಳಿ.
ಕಾಯವಳಿಯದ ಮುನ್ನವೆ ಕೂಡಿಕೊಳ್ಳಬಲ್ಲಡೆ,
ಗುಹೇಶ್ವರನು ಬೇರಿಲ್ಲ ಕಾಣಿರೆ. ॥೧೮॥

೭೧೩

ಅಂಗನೆಯ ಮೊಲೆ ಲಿಂಗವೆ ? ಬಳ್ಳ ಲಿಂಗವೆ ?
ಕಿತ್ತು ಬಹ ಸಾಣೆ ಲಿಂಗವೆ ? ಆಡಿನ ಹಿಕ್ಕಿ ಲಿಂಗವೆ ?
ಮೆಚ್ಚುವರೆ ಪ್ರಮಥರು ? ಮೆಚ್ಚುವರೆ ಪುರಾತನರು, ನಿಮ್ಮ ಭಕ್ತರು ?
ಭಾವಭ್ರಮೆಯಳಿದು, ಗುಹೇಶ್ವರಾ
ನಿಮ್ಮಲ್ಲಿ ಅನಾದಿಸಂಸಿದ್ಧವಾದ ಜಂಗಮವನರಿದಾತ
ಬಸವಣ್ಣನೊಬ್ಬನೆ. ॥೧೯॥

೭೧೪

ಅಂಗ ಮೂವತ್ತಾರರ ಮೇಲೆ ಲಿಂಗ.
ನಿಸ್ಸಂಗವೆಂಬ ಕರದಲ್ಲಿ ಹಿಡಿದು ಅಂಗವಿಸಿ,
ಅಹುದು ಆಗದು ಎಂಬ ನಿಸ್ಸಂಗದ ಅರ್ಪಣವ ಮಾಡಿ
ಸುಸಂಗ ಪ್ರಸಾದವ ಕೊಳಬಲ್ಲವಂಗೆ
ಗುಹೇಶ್ವರಾ, ಮುಂದೆ ಬಯಲು ಬಯಲು ಬಟ್ಟ ಬಯಲು ! ॥೨೦॥

೭೧೫

ಅಂಗವಿಕಾರ ಆಚಾರದೊಳಡಗಿ, ಆಚಾರಕ್ರೀಗಳು ಗುರುವಿನೊಳಡಗಿ,
ಗುರುವೆನ್ನ ಅಂಗದೊಳಗಡಗಿ; ಅಂಗ ಲಿಂಗನಿಷ್ಠೆಯೊಳಡಗಿ,
ಲಿಂಗನಿಷ್ಠೆ ಅಂಗದಾಚರಣೆಯ ಆಚಾರವಾವರಸಿ,
ಆಚಾರದ ನಿಲವ ಗುರುಮೂರ್ತಿಯಾವರಸಿ,
ಗುರುಮೂರ್ತಿಯ ಸರ್ವಾಂಗವಾವರಸಿ,
ಸರ್ವಾಂಗವ ಲಿಂಗನಿಷ್ಠೆಯಾವರಿಸಿ, ಲಿಂಗನಿಷ್ಠೆಯ ಸಾವಧಾನವಾವರಿಸಿ,
ಸಾವಧಾನವ ಸುವಿಚಾರವಾವರಿಸಿ, ಸುವಿಚಾರವ ಮಹಾಜ್ಞಾನವಾವರಿಸಿ,
ಮಹಾಜ್ಞಾನದೊಳಗೆ ಪರಮಾನಂದನಿಜನಿಂದು
ನಿಜದೊಳಗೆ ಪರಮಾಮೃತ ತುಂಬಿ–
ಮೊದಲ ಕಟ್ಟೆಯನೊಡೆದು, ನಡುವಣ ಕಟ್ಟೆಯನಾಂತು ನಿಂದು,
ನಡುವಣ ಕಟ್ಟೆಯೂ ಮೊದಲ ಕಟ್ಟೆಯೂ ಕೂಡಿ ಬಂದು,
ಕಡೆಯಣ ಕಟ್ಟೆಯನಾಂತುದು.
ಈ ಮೂರುಕಟ್ಟೆಯೊಡೆದ ಮಹಾಜಲವನು ಪರಮಪದವಾಂತುದು.
ಆ ಪದದಲ್ಲಿ ನಾನು ಎರಗಿ, ಪಾದೋದಕವ ಕೊಂಡು
ಎನ್ನ ನಾನರಿಯದಾದೆ ಕಾಣಾ ಗುಹೇಶ್ವರಾ. ॥೨೧॥

೭೧೬

ಅಂಗವಿಕಾರಿ ಲಿಂಗವಿಕಾರಿಯನರಿಯ.
ಲಿಂಗವಿಕಾರಿ ಅಂಗವಿಕಾರಿಯನರಿಯ.
ಅಂಗವೇ ದಿಂಡುನಾಳ ಲಿಂಗ[ವೇ.....] ನವ ಸುರಾಳ
ಕಳಚಿದಡೆ ತೋರಲಿಲ್ಲ. ತೋರಿದಡೆ ಬೆಚ್ಚಲಿಲ್ಲ.
ಸುರುಳಿನೊಳಗೆ ಸುತ್ತಿ ಹೊರಗಿರಿಸಿದೆನು ಕಾಣಾ–ಗುಹೇಶ್ವರಾ. ॥೨೨॥

೭೧೭

ಅಂಗವಿಡಿದಂಗಿಯನೇನೆಂಬೆ ?
ಆರನೊಳಕೊಂಡ ಅನುಪಮನು ನೋಡಾ !
ಮೂರರ ಹೊಲಿಗೆಯ ಬಿಚ್ಚಿ, ಎಂಟಾತ್ಮ ಹರಿಗಳ
ತನ್ನಿಚ್ಛೆಯೊಳ್ ನಿಲಿಸಿದ ನಿಜಸುಖಿಯು ನೋಡಾ.
ತತ್ವ ಮೂವತ್ತಾರ ಮೀರಿ,
ಅತ್ತತ್ತವೆ ತೋರ್ಪ ಅಗಮ್ಯನು ನೋಡಾ !
ನಮ್ಮ ಗುಹೇಶ್ವರನ ಶರಣ ಅಲ್ಲಯ್ಯನ ಇರವನೊಳಕೊಂಡ
ಪರಮಪ್ರಸಾದಿ ಮರುಳಶಂಕರದೇವರ ನಿಲವ
ಬಸವಣ್ಣನಿಂದ ಕಂಡೆ ನೋಡಾ ಸಿದ್ಧರಾಮಯ್ಯಾ. ॥೨೩॥

೭೧೮

ಅಂಗವಿಡಿದು, ಅಂಗ ಅನಂಗವೆಂಬೆರಡನೂ ಹೊದ್ದದ
ಮಹಿಮನ ನೋಡಾ !
ಅಂಗವೆ ಆಚಾರವಾಗಿರಬಲ್ಲ, ಆಚಾರವೆ ಅಂಗವಾಗಿರಬಲ್ಲನಾಗಿ
ಅಂಗವಿಲ್ಲದಪ್ರತಿಮ ನೋಡಾ !
ಆಚಾರವೆ ಸ್ವಾಯತ, ಆಚಾರವೆ ಪ್ರಾಣ !
ಗುಹೇಶ್ವರಲಿಂಗದಲ್ಲಿ ನಿನ್ನ ಆಚಾರಭಿಕ್ಷವನಿಕ್ಕಾ ಚನ್ನಬಸವಣ್ಣಾ. ॥೨೪॥

೭೧೯

ಅಂಗವಿಲ್ಲದ ಅನುಭಾವಕ್ಕೆ ನೇಮವಿಲ್ಲದ ನೆನಹು
ತಾಗು ತಡೆಯಿಲ್ಲದ ಸುಮ್ಮಾನದ ಸುಖ.
ಗುಹೇಶ್ವರ ನಿರಾಳ ಕಂಡಾ ! ॥೨೫॥

೭೨೦

ಅಂಗವೆಂಬ ಸಂಸಾರದೊಳಗೆ ಸವೆದವರೆಲ್ಲರೂ ಶಿವನನರಿವರೆ ?
ಮನವೆಂಬ ಸಂಕಲ್ಪದ ಕುಣಿಕೆಗೊಳಗಾದವರೆಲ್ಲರೂ
ಮಾಯದ ಹೊಡೆಗಿಚ್ಚ ಗೆಲ್ಲಬಲ್ಲರೆ ?
ಗುಹೇಶ್ವರಲಿಂಗದಲ್ಲಿ ಸರ್ವಸಂದೇಹವ ಕಳೆದಿಪ್ಪ
ಚನ್ನಬಸವಣ್ಣಂಗೆ ನಮೋ ನಮೋ ಎಂಬೆನು. ॥೨೬॥

೭೨೧

ಅಂಗಸಂಸಾರ ಲಿಂಗದಲ್ಲಿತ್ತು ಅರತು
ಕಾಯವೆಂಬ ಸಂಬಂಧ ಸಂಶಯವಳಿದು
ನಿಸ್ಸಂದೇಹಿಯಾಗಿಪ್ಪನು ನೋಡಾ ಬಸವಣ್ಣನು.
ಪ್ರಾಣ ಭಾವವೆಂಬ ಶಂಕೆ ತಲೆದೋರದೆ
ನಿಶ್ಶಂಕನಿಜೈಕ್ಯನಾಗಿಪ್ಪನು ನೋಡಾ ಬಸವಣ್ಣನು.
ಆ ಬಸವಣ್ಣನ ಅಂತರಂಗದಲ್ಲಿ ನಿಶ್ಚಿಂತನಿವಾಸಿಯಾಗಿದ್ದೆನು.
ಆ ಬಸವಣ್ಣನ ಅಂತರಂಗದಲ್ಲಿ ನಿರಾಲಂಬಜ್ಞಾನಿಯಾಗಿದ್ದೆನು.
ಆ ಬಸವಣ್ಣನೊಳಗೆ ನಾನು ಅಳಿದುಳಿದೆನು.
ಬಸವಣ್ಣನೆನ್ನ ಅಂತರಂಗದೊಳಗೆ ನಿಜನಿವಾಸಿಯಾಗಿದ್ದನು.
ಇದು ಕಾರಣ: ಒಂದಕ್ಕೊಂದ ಬಿಚ್ಚಿ ಬೇರು(ರೆ?) ಮಾಡಬಾರದು ನೋಡಾ.
ಗುಹೇಶ್ವರಲಿಂಗದಲ್ಲಿ 'ಸಂಗನಬಸವ-ಪ್ರಭು'ವೆಂಬ ಎರಡು ಭಾವಭ್ರಾಂತಿಯಳಿದು,
ನಿರ್ಭ್ರಾಂತಿ ಎಡೆಗೊಂಡಿತ್ತು ನೋಡಾ ಚನ್ನಬಸವಣ್ಣಾ. ॥೨೮॥

೭೨೨

ಅಂಗಸೋಂಕೆಂಬುದು ಅಧಮವು.
ಉರಸೆಜ್ಜೆಯೆಂಬುದು ಎದೆಯ ಗೂಂಟ.
ಕಕ್ಷೆಯೆಂಬುದು ಕವುಚಿನ ತವರುಮನೆ.
ಅಮಳೋಕ್ಯವೆಂಬುದು ಬಾಯ ಬಗದಳ.
ಮುಖಸೆಜ್ಜೆಯೆಂಬುದು ಪಾಂಡುರೋಗ.
ಕರಸ್ಥಳವೆಂಬುದು ಮರವಡದ ಕುಳಿ.
ಉತ್ತಮಾಂಗವೆಂಬುದು ಸಿಂಬಿಯ ಕಪ್ಪಡ.
ಎಲ್ಲರಿಗೆಯೂ ಸೋಂಕಾಯಿತ್ತು !
ಈ ಹಸಿಯ ಗೂಂಟದಲ್ಲಿ ಕಟ್ಟಿ, ಒಣಗಿದ ಗೂಂಟದಲ್ಲಿ ಬಿಡುವ
ಬಾಲಭಾಷೆಯ ಭಂಡರ ನುಡಿಯ ಕೇಳಲಾಗದು ಗುಹೇಶ್ವರಾ. ॥೨೦॥

೭೨೩

ಅಂಗಳ[ದ] ಬಾಗಿಲ ನೆಲೆಯಲ್ಲಿ ನಿಂದಿದ್ದ ಲಿಂಗವನರಿದುದಿಲ್ಲವೆ ?
ಸುಸಂಗಿ ನಿರಂಗಿ ನಿಷ್ಕಲಬ್ರಹ್ಮ ಮರುಳಶಂಕರಲಿಂಗ !
ಪ್ರಸಾದದ ಕುಳಿಯಲ್ಲಿ ನಿಜನಿವಾಸದ ಅಂಗವ ನೋಡು.
ಗುಹೇಶ್ವರಲಿಂಗದಲ್ಲಿ ಬಸವಣ್ಣಾ. ॥೨೯॥

೭೨೪

ಅಂಗೈಯ ಲಿಂಗದಲ್ಲಿ ಕಂಗಳ ನೋಟ ಸ್ವಯವಾದ ಇರವ ನೋಡಾ !
ತನ್ನ ಸ್ವಾನುಭಾವದ ಉದಯದಿಂದ ತನ್ನ ತಾನರಿದ ನಿಜಶಕ್ತಿಯ ನೋಡಾ !
ಭಿನ್ನವಿಲ್ಲದರಿವು, ಮನ್ನಣೆಯ ಮಮಕಾರವ ಮೀರಿದ ಭಾವ !
ತನ್ನಿಂದ ತಾನಾದಳು !
ನಮ್ಮ ಗುಹೇಶ್ವರಲಿಂಗದಲ್ಲಿ ಸ್ವಯಲಿಂಗವಾದ
ಮಹಾದೇವಿಯಕ್ಕಗಳ ನಿಲವಿಂಗೆ
ನಮೋ ನಮೋ ಎನುತಿರ್ದೆನು ಕಾಣಾ ಚನ್ನಬಸವಣ್ಣ. ||೩೦||

೭೨೫

ಅಂಗೈಯೊಳಗೊಂದು ಅರಳ್ದ ತಲೆಯ ಹಿಡಿದುಕೊಂಡು
ಕಂಗಳ ಮುತ್ತ ಪವಣಿಸುವಾಕೆ ನೀನಾರು ಹೇಳಾ ?
ಸಂದ ಸಂಪಿಗೆಯರಳ ತುಂಬಿ ಬಂದುಂಬ ಭೇದವನರಿಯದೆ
ಹಂಬಲಿಸುವ ಪರಿತಾಪವೇನು ಹೇಳಾ ?
ಒಂದೆಂಬೆನೆ ಎರಡಾಗಿದೆ ಎರಡೆಂಬೆನೆ ಒಂದಾಗಿದೆ
ಅರಿವಿನೊಳಗಣ ಮರಹಿದೇನು ಹೇಳಾ ?
ದುಃಖವಿಲ್ಲದ ಅಕ್ಕೆ, ಅಕ್ಕೆಯಿಲ್ಲದ ಅನುತಾಪ
ನಮ್ಮ ಗುಹೇಶ್ವರಲಿಂಗದಲ್ಲಿ ತೋರುತ್ತಿದೆ.
ನೀನಾರೆಂದು ಹೇಳಾ ಎಲೆ ಅವ್ವಾ ? ||೩೦||

೭೨೬

ಅಂಜಬೇಡ ಅಳುಕಬೇಡ;
ಹೋದವರಾರು ಇದ್ದವರಾರು ? ಎಲೆ ಮರುಳೆ !
ಒಂದು ಮುಖದಲ್ಲಿಪ್ಪ ದೇವನೊಬ್ಬನೆ.
ಹಲವು ಮುಖದಲ್ಲಿಪ್ಪ ದೇವನೊಬ್ಬನೆ.
ನಾಮ ಹಲವಲ್ಲದೆ ಕಾರ್ಯ ಒಂದೇ ನೋಡಾ !
ಮನದೊಳಗಣ ಘನವು ತನುವನಗಲುವುದೆ ?
ಗುಹೇಶ್ವರಲಿಂಗದಲ್ಲಿ ವಿಯೋಗಕ್ಕೆ ತೆರಹಿಲ್ಲ ಕೇಳಾ, ಸಂಗನಬಸವಣ್ಣ. ||೩೨||

೭೨೭

ಅಂಡಜ ಒಡೆಯದರಿಂದ ಮುನ್ನ,
ದ್ವೀಪಾದ್ವೀಪವಿಲ್ಲದ ಮುನ್ನ,
ಅನಲಪವನರಿಲ್ಲದ ಮುನ್ನ,

ರವಿಚಂದ್ರರಿಲ್ಲದ ಮುನ್ನ,
ಗುಹೇಶ್ವರಲಿಂಗವಲ್ಲಿಂದ ಮುನ್ನ. ॥೩೩॥

೭೨೮

ಅಂಡಜವಳಯವಿಲ್ಲದ ಮುನ್ನ,
ದ್ವೀಪಂಗಳೇಳೂ ಇಲ್ಲದ ಮುನ್ನ,
ರವಿಚಂದ್ರರಿಲ್ಲದ ಮುನ್ನ,
ತ್ರಿದೇವತೆಗಳಿಲ್ಲದ ಮುನ್ನ,
ಗುಹೇಶ್ವರನು ಉಲುಹಡಗಿರ್ದನುದು ಅನಂತಕಾಲ ! ॥೩೪॥

೭೨೯

ಅಂಡವ ಮೇಲು ಮಾಡಿ ಪಿಂಡಿಯಾಗಿ,
ಆ ಅಂಡದೊಳಗೆ ನಾಲ್ಕು ಕೈಕರಣ ಅನೇಕ ಉದ್ಧವಾದವು !
ಆ ಕೈಕರಣದೊಳಗೊಬ್ಬ ಶರಣ, ದಾಸೋಹಮೆನಲು,
ಆ ಕ್ಷಣ ಒಂದು ಸೋಜಿಗ ಮೂಡಿತ್ತ ಕಂಡೆ ಗುಹೇಶ್ವರಾ. ॥೩೫॥

೭೩೦

ಅಂತರಂಗದಲ್ಲಿ ಅಡಗಿತ್ತೆಂದಡೆ ಭಾವಕ್ಕೆ ಪೂಜ್ಯವಲ್ಲ.
ಬಹಿರಂಗದಲ್ಲಿ ಅಡಗಿತ್ತೆಂದಡೆ ಕ್ರಿಯಾಬದ್ಧವಲ್ಲ.
ಅರಿವಿನೊಳಗೆ ಅಡಗಿತ್ತೆಂದಡೆ ಮತಿಗೆ ಹವಣಲ್ಲ.
ಭಾವ ನಿರ್ಭಾವ ನಿಶ್ಶೂನ್ಯವನು ಕಾಂಬ ಪರಿ ಎಂತು ಹೇಳಾ ?
ಕಂಡು ತನ್ನೊಳಗಿಂಬಿಟ್ಟುಕೊಂಬ ಪರಿ ಎಂತು ಹೇಳಾ ?
ಗುಹೇಶ್ವರನೆಂಬ ಲಿಂಗವನರಿದು ಕೂಡಿ
ಸುಖಿಯಹ ಪರಿ ಎಂತು ಹೇಳಾ ಸಂಗನಬಸವಣ್ಣ ? ॥೩೬॥

೭೩೧

ಅಂತರಂಗದೊಳಗಿಲ್ಲ ಬಹಿರಂಗದೊಳಗಿಲ್ಲ
ಮತ್ತಾವ ದೆಸೆ ದಿಕ್ಕಿನೊಳಗೆಯೂ ಇಲ್ಲ.
ಏನಾಯಿತ್ತೆಂದರಿಯೆ ಎಂತಾಯಿತ್ತೆಂದರಿಯೆ
ಅದೆಂತೆಂದರೆ:
"ಅಂತಃ ಶೂನ್ಯಂ ಬಹಿಃಶೂನ್ಯಂ ಶೂನ್ಯಂ ಶೂನ್ಯಂ ದಿಶೌ ದಿಶೌ !
ಸರ್ವಶೂನ್ಯಂ ನಿರಾಲಂಬಂ ನಿರ್ದ್ವಂದ್ವಂ ಪರಮಂ ಪದಂ ॥

ಎಂಬುದಾಗಿ–ಅಲ್ಲಿ ಇಲ್ಲಿ ಎಲ್ಲಿಯೂ ಇಲ್ಲ.
ಗುಹೇಶ್ವರ ಬಯಲು. ॥೩೭॥

೭೩೨

ಅಂದಂದಿಗೆ ಬಂದ ಧನವನಂದಂದಿಂಗೆ ವೆಚ್ಚವ ಮಾಡಿ
ಹಿಂದು ಮುಂದ ಸಮವ ಮಾಡಿ,
ಮಧ್ಯ ನಿರಾಳ ಊರ್ಧ್ವ ತಾನಾಗಿದ್ದು ಇಲ್ಲದಂತಿಪ್ಪಡೆ
ಇದೇ ತೆರನು ಕಂಡಯ್ಯಾ.
ಆರ ವಶವಲ್ಲದ ಪುರುಷನೊಬ್ಬನ ಸಾಧಿಸಿಕೊಳಬಲ್ಲಡೆ
ಆ ಹಿರಿಯರಿಬ್ಬರೂ ತನ್ನ ವಶರಪ್ಪರು.
ಆ ಹಿರಿಯರಿಬ್ಬರೂ ತನ್ನವರಾದಡೆ ಸರ್ವವೂ ಸಾಧ್ಯವಪ್ಪುದು.
ಸರ್ವವೂ ಸಾಧ್ಯವಾದಡೆ ತಾನಿಲ್ಲ.
ಬಯಲಹುದಕ್ಕೆ ಇದೇ ಚಿಹ್ನ ನೋಡಾ–
ಹೀಗೆಂದು ನಂಬುವುದು
ನಂಬದಿದ್ದಡೆ ಚೆನ್ನಬಸವಣ್ಣನ ಹೊಣೆಯ ಕೊಡುವೆ ಕಾಣಾ ಗುಹೇಶ್ವರಾ. ॥೩೮॥

೭೩೩

ಅಂದಂದಿನ ಮಾತನು ಅಂದಂದಿಗೆ ಅರಿಯಬಾರದು.
ಹಿಂದೆ ಹೋದ ಯುಗಪ್ರಳಯಂಗಳ ಬಲ್ಲವರಾರಯ್ಯಾ ?
ಮುಂದೆ ಬಪ್ಪ ಯುಗಪ್ರಳಯಂಗಳ ಬಲ್ಲವರಾರಯ್ಯಾ ?
ಬಸವಣ್ಣನು ಆದಿಯಲ್ಲಿ ಲಿಂಗಶರಣನೆಂಬುದ
ಭೇದಿಸಿ ನೋಡಿ ಅರಿವರಿನ್ನಾರಯ್ಯಾ ?
ಲಿಂಗ ಜಂಗಮ ಪ್ರಸಾದದ ಮಹಾತ್ಮೆಗೆ
ಬಸವಣ್ಣನೆ ಆದಿಯಾದನೆಂಬುದನರಿದ ಸ್ವಯಂಭು ಜ್ಞಾನಿ,
ಗುಹೇಶ್ವರಲಿಂಗದಲ್ಲಿ ಚನ್ನಬಸವಣ್ಣನೊಬ್ಬನೆ. ॥೩೯॥

೭೩೪

ಅಂದಾದಿಬಿಂದುವಿಲ್ಲದಂದು ಅಂದಾ ಜೀವನೆಲ್ಲಿಪ್ಪುದೊ ?
ಪಿಂಡ ರೂಪಿಸುವಲ್ಲಿ ಆ ಜೀವ ಬಂದು ಪರಿಯೆಂತುಟೊ ?
ಇದನರಿದಡೆ ಗುರುವೆಂಬೆ, ಲಿಂಗವೆಂಬೆ, ಜಂಗಮವೆಂಬೆ,
ಅಲ್ಲದಿದ್ದಡೆ ನರನೆಂಬೆ ಕಾಣಾ ಗುಹೇಶ್ವರಾ. ॥೪೦॥

೭೩೫

ಅಂದಿನ ದಿನವನಂತಿರಿಸಿ, ಇಂದಿನ ದಿನವನಿಂತಿರಿಸಿ,
ತಾ ಬೇರೆ ಮತ್ತೊಂದು ಪರಿಯಾದ ಅಪ್ಪಣ್ಣನು.
ಅಂದಿನವನಂತಾಗದೆ ಇಂದಿನವನಂತಾಗದೆ, ಅಂತಿಂತುವ ಕೆಡಿಸಿ
ಮತ್ತೊಂದಾದನು(ನ?)ವ.
ಶ್ರುತಿಗೆಟ್ಟು ಮತಿಗೆಟ್ಟು ಹದಗೆಟ್ಟು ಹವಣುಗೆಟ್ಟು,
ಬಿಮ್ಮುಗೆಟ್ಟು ಬೆಮಳ ವಿಮಳನಾದ ಅಪ್ಪಣ್ಣನು.
ಗಣಿತ ಗುಣಿತವನಳಿದುಳಿದು,
ಅಗಣಿತನಚಳಿತನಾದ ಅಪ್ಪಣ್ಣನು.
ಅಮಳೋಕ್ಯವಾದ ಘನವ, ಅಮಳೋಕ್ಯವಾದ ಮಹವ,
ಅಮಳೋಕ್ಯವಾದ ನಿಜದ ನಿಲವ ;
ಕುಲಗೆಟ್ಟ, ಛಲಗೆಟ್ಟ, ಲಜ್ಜೆಗೆಟ್ಟ, ಭವಗೆಟ್ಟ
ಗುಹೇಶ್ವರನ ಶರಣ ಸಂಗಮೇಶ್ವರದ ಅಪ್ಪಣ್ಣನು. ॥೪೧॥

೭೩೬

ಅಂದು ನೀ ಬಂದ ಬೆಂಬಳಿಯಲ್ಲಿ ನಾ ಬಂದೆ.
ಅಂದಂದಿನ ಸಂದೇಹ ಹರಿಯಿತ್ತು.
ನೀ ಭಕ್ತನಾಗಿ ನಾ ಜಂಗಮವಾಗಿ,
ಗುಹೇಶ್ವರಲಿಂಗವೆಂಬುದಕ್ಕೆ ಅಂಗವಾಯಿತ್ತು. ॥೪೨॥

೭೩೭

ಅಂದೊಮ್ಮೆ ಧರೆಯ ಮೇಲೆ ಉದಕವಿಲ್ಲದಂದು
ಕೆಳಯಿಂಕೆ ಪಾದವ ನೀಡಿದೆಯಲ್ಲಾ ಬಸವಣ್ಣ
ಧರೆಯ ತಾಗಿದ ಪಾದವ ಧಿಗಿಲನೆ ಎತ್ತಲು
ಭುಗಿಲೆನೆ ಉದಕವೆದ್ದು ನಿಮ್ಮ ಉರಸ್ಥಲಕೆ ಬಾರದೆ ?
ಕನಲಿ ಎದ್ದು ಅಂಕೆಗೆ (ಆಚೆಗೆ ?) ನಿಂದು ನೋಡಲು
ಸಪ್ತ ಸಾಗರಂಗಳೆಲ್ಲವು ನಿಮ್ಮ ಕಿರುಪಾದದಲ್ಲಿ ಅಡಗವೆ ಬಸವಣ್ಣಾ ?
ಅದನೆಂತು ಕೊಡಬಹುದು. ಅದನೆಂತು ಕೊಳಬಹುದು ?
ನಮ್ಮ ಗುಹೇಶ್ವರಲಿಂಗಕ್ಕೆ
ನಿಮ್ಮ ಪಾದೋದಕವೆ ಮಜ್ಜನ ಕಾಣಾ ಸಂಗನಬಸವಣ್ಣ. ॥೪೩॥

೭೩೮

ಅಂಬುಧಿಯೊಳಗಾದ ನದಿಗಳು ಮರಳುವುವೆ ?
ಉರಿಯೊಳಗಾದ ಕರ್ಪುರ ರೂಪಿಂಗೆ ಬಪ್ಪುದೆ ?
ಮರುತನೊಳಗಾದ ಪರಿಮಳ ಲೇಪನಕ್ಕೆ ಬಪ್ಪುದೆ ?
ಲಿಂಗವನರಿದು ಲಿಂಗೈಕ್ಯವಾದ ಶರಣ
ಮರಳಿ ಹುಟ್ಟುವನೆ ಗುಹೇಶ್ವರಾ ? ॥೪೪॥

೭೩೯

ಅಕಟಕಟಾ ದೇಹಾರ ಅಭ್ಯಾಸವಾಯಿತ್ತಲ್ಲಾ !
ಅಕಟಕಟಾ ಓಗರ ಉಪಹಾರವಾಯಿತ್ತಲ್ಲಾ !
ಅಕಟಕಟಾ ಅನುಭಾವ ಹೊಲಬುಗೆಟ್ಟು ಹೋಯಿತ್ತಲ್ಲಾ !
ಅಕಟಕಟಾ ಷೋಡಶೋಪಚಾರವನರಿಯದೆ
ಕೆಟ್ಟರಲ್ಲಾ ಗುಹೇಶ್ವರಾ. ॥೪೫॥

೭೪೦

ಅಕಲ್ಪಿತ ನಿತ್ಯ ನಿರಂಜನ ನಿರವಯ ನಿರಾಕಾರ ಪರಂಜ್ಯೋತಿ ಲಿಂಗದಲ್ಲಿ
ಅಂತರಾತ್ಮಲಿಂಗ ಉತ್ಪತ್ತಿಯಾಯಿತ್ತು.
ಆ ಅಂತರಾತ್ಮಲಿಂಗದಲ್ಲಿ ಜೀವಾತ್ಮಲಿಂಗ ಉತ್ಪತ್ತಿಯಾಯಿತ್ತು.
ಆ ಅಂತರಾತ್ಮನೆ ಗುರು ಜೀವಾತ್ಮನೆ ಶಿಷ್ಯ. ಪರಮಾತ್ಮನೆ ಲಿಂಗ–
ಇದು ಪ್ರಸಿದ್ಧವಾಕ್ಯ ನೋಡಯ್ಯಾ.
ಲಿಂಗದೊಳಗಣ ಬೀಜ ಜಂಗಮು.
ಆ ಜಂಗಮದ ಪ್ರಕಾಶವೆ ಗುರು,
ಆ ಜಂಗಮದ ನಿರಾಕಾರವೆ ಲಿಂಗ.
ಪರಮಾತ್ಮನೆ ಪ್ರಾಣಸ್ವರೂಪವೆಂಬ ಜಂಗಮು.
ಈ ಗುರುಲಿಂಗಜಂಗಮುವೆಂಬ ತ್ರಿವಿಧವು, ಏಕವೆಂದರಿಯದ ಕಾರಣ,
ಬ್ರಹ್ಮ ಮುಂದುಗಾಣ, ಹರಿ ಹೊಲಬುಗೆಟ್ಟ, ರುದ್ರ ಧ್ಯಾನಾರೂಢನಾದ.
ಇವರಂಡಜದೊಳಗಣ ಬಾಲಕರೆತ್ತ ಬಲ್ಲರು ಗುಹೇಶ್ವರಾ.
ನಿಮ್ಮ ಮಹತ್ವವ ? ॥೪೬॥

೭೪೧

ಅಕಲ್ಪಿತ ನಿತ್ಯ ನಿರಂಜನ ನಿಃಸೀಮ ನಿರವಯ
ಅಖಂಡ ಪರಿಪೂರ್ಣ ಪರಂಜ್ಯೋತಿಯಾದ

ಮಹಾ ಘನವಸ್ತುವಿನಲ್ಲಿ ಪರಮಾತ್ಮನುತ್ಪತ್ತಿ.
ಆ ಪರಮಾತ್ಮನಿಂದ ಅಂತರಾತ್ಮನುತ್ಪತ್ತಿ.
ಆ ಅಂತರಾತ್ಮನಿಂದ ಜೀವಾತ್ಮನುತ್ಪತ್ತಿ.
ಈ ತ್ರಯಾತ್ಮರೊಳಗೆ ಜೀವ–ಅಂತರಾತ್ಮಾದಿಗಳೆ ಪಾಶಬದ್ಧರು
ಪರಮಾತ್ಮನೆ ಪಾಶಮುಕ್ತನು.
ಈ ಸಂಚವನರಿದ ದ್ವಂದ್ವರಹಿತ ತಾನೆ
ನಮ್ಮ ಗುಹೇಶ್ವರಲಿಂಗದಲ್ಲಿ ಯಂತ್ರವಾಹಕನೆನಿಸುವನು. ॥೪೭॥

೭೪೨

ಅಕಲ್ಪಿತನೆಂಬ ಭಕ್ತ ಮಾಡಿದ ಸೈದಾನವ ನೋಡಾ !
ಅನಂತಕೋಟಿ ಅಜಾಂಡಂಗಳೆ ಸೈದಾನವಾಗಿ,
ಸವಿಕಲ್ಪಿತ ಸುಖಂಗಳೆಂಬವೆ ಶಾಕವಾಗಿ,
ಸರ್ವಸ್ವಾದವೆಂಬುದೆ ಅಭಿಗಾರವಾಗಿ,
ಇವೆಲ್ಲವನು ಸಹಜವೆಂಬ ಭಾಜನದಲ್ಲಿ ಎಡೆ ಮಾಡುತ್ತಿರಲು
ಉಣಬಂದ ಹಿರಿಯರು ಉಣುತ್ತಿದ್ದರು ನೋಡಾ !
ನಿರ್ವಿಕಲ್ಪವೆಂಬ ಮಹಂತ ಬರಲು ಸೈದಾನವಡಗಿತ್ತು ಭಾಜನ ಉಳಿಯಿತ್ತು.
ಆ ಭಾಜನವ ಉತ್ತರನಿರಾಳದಲ್ಲಿ ಅಳವಡಿಸಿಕೊಳಲು
ನಿಶ್ಚಳ ಘನಪ್ರಸಾದವಾಯಿತ್ತು ಗುಹೇಶ್ವರಾ. ॥೪೮॥

೭೪೩

ಅಕಾರದಾದಿಯನರಿ, ಕ್ಷಕಾರದಂತ್ಯವ ತಿಳಿ.
ಅಕಾರ ಉಕಾರ ಮಕಾರದೊಳಗಣ ಓಂಕಾಪ್ರಭೆಯ ತಿಳಿ.
ವೇದಾದಿ ಪಂಚಕದಾದಿಯನರಿ.
ಐಶ್ವರ್ಯ ಮೊದಲಾದ್ಯೈದು ನಾಮವನುಳ್ಳ
ವಿಭೂತಿ ಭಸಿತ ಭಸ್ಮ ಕ್ಷಾರ ರಕ್ಷೆ ಎಂಬೈದು
ನಿನ್ನಭಿಮುಖದಿಂದ ಜನನವೆ ಹೇಳು ಗುಹೇಶ್ವರಾ ? ॥೪೯॥

೭೪೪

ಅಕ್ಷರವ ನೋಡಿ ಅಭ್ಯಾಸವ ಕಲಿತು,
ನಾನಾವರ್ಣವನಿಟ್ಟು (ಕಳೆವಿರಿ?)ಭೋ,
ಸ್ವರೂಪಾಧಿಕನಲ್ಲ ನಿರೂಪಾಧಿಕನಲ್ಲ,
ಮಹಾಘನವು ಕಾಣ ಭೋ.
ಆದಿನಿರಾಳ ಮಧ್ಯನಿರಾಳ ಊರ್ಧ್ವನಿರಾಳ ಗುಹೇಶ್ವರಯ್ಯನು ತಾನೆ. ॥೫೦॥

೭೪೫

ಅಗ್ಗಣಿತಹೈಸಕ್ಕೆ ಅನಂತಯುಗಂಗಳು ಹೋಗುತ್ತಿವೆಯಯ್ಯಾ.
ಪುಷ್ಪತಹೈಸಕ್ಕೆ ಅನಂತಯುಗಂಗಳು ಹೋಗುತ್ತಿವೆಯಯ್ಯಾ.
ಲಿಂಗಾರ್ಚನೆ ಘನಲಿಂಗಕ್ಕೆಡೆಯಿಲ್ಲ !
ಗುಹೇಶ್ವರಾ ಸಿದ್ಧರಾಮಯ್ಯದೇವರಿಗೆ ಆರೋಗಣೆಯಿಲ್ಲ,
ಶರಣರಿಗೆ ಪ್ರಸಾದವಿಲ್ಲ. ||೫೦||

೭೪೬

ಅಗ್ಘವಣಿಯ ತಂದು ಮಜ್ಜನವ ಮರೆದವನ,
ಪುಷ್ಪವ ತಂದು ಪೂಜೆಯ ಮರೆದವನ,
ಓಗರವ ತಂದು ಅರ್ಪಿತವ ಮರೆದವನ,
ಲಿಂಗವ ಕಂಡು ತನ್ನ ಮರೆದವನ,
ಮಹಾಘನವ ಒಳಕೊಂಡಿತ್ತು ಗುಹೇಶ್ವರ. ||೫೧||

೭೪೭

ಅಚ್ಚಪ್ರಸಾದಿ ನಿಚ್ಚಪ್ರಸಾದಿಯೆಂಬ ಮುಚ್ಚಟ ಮುದಿಹೊಲೆಯರಿರಾ
ನೀವು ಕೇಳಿರೊ.
ಮುಟ್ಟುವ ಯೋನಿ ಮೆಟ್ಟುವ ಪಾದರಕ್ಷೆ ಈ ಎರಡೆಂಬ ಉಭಯಭ್ರಷ್ಟರಿಗೆ
ಎಲ್ಲಿಯದೊ ಪ್ರಸಾದ ಗುಹೇಶ್ವರಾ ? ||೫೩||

೭೪೮

ಅಜ್ಞಾನ ಸುಜ್ಞಾನಗಳೆರಡೂ ಶಿವನೆಂದಡೆ
ಶಿವಜ್ಞಾನಿಗಳು ಮೆಚ್ಚುವರೆ ?
ಶಿವ ಶಕ್ತಿಗಳೆರಡೂ ನೀನೇ ಎಂದಡೆ
ಮಹಾನುಭಾವಿಗಳು ಪರಿಣಾಮಿಸುವರೆ ?
ತನ್ನ ತಾನಾರೆಂಬುದನರಿಯದೆ, ಅನ್ಯವೆಲ್ಲವೂ ಬೊಮ್ಮವೆಂಬ,
ಈ ಕರ್ಮದ ನುಡಿಯ ಮೆಚ್ಚುವನೆ ನಮ್ಮ ಗುಹೇಶ್ವರಲಿಂಗವು ? ||೫೪||

೭೪೯

ಅಟ್ಟದ ಮೇಲೆ ಹರಿದಾಡುವ ಇಲಿ
ಕಾದಿರ್ದ ಬೆಕ್ಕ ತಪ್ಪಿಸಿ,

ಬೆಕ್ಕಿನ ಕಣ್ಣೊಳಡಗಿತ್ತು !
ಕಣ್ಣೂ ಇಲಿಯೂ ಕೂಡೆ
ಗುಹೇಶ್ವರಲಿಂಗವ ಕಂಡುದಿಲ್ಲ. ॥೫೫॥

೭೫೦

ಅಟ್ಟಿಮುಟ್ಟಿತ್ತು ಮನ,
ದೃಷ್ಟಿ ಲಿಂಗದ ಮೇಲೆ,
ತನ್ನ ತಾನರಿದಾತ ತಾನೆ ಮರೆದ
ಗುಹೇಶ್ವರ ಅಲ್ಲಯ್ಯ ನಿಶ್ಶಬ್ದ ಲಿಂಗದಲ್ಲಿ. ॥೫೬॥

೭೫೧

ಅಟ್ಟುವದನಡಲುಂಟೆ ? ಸುಟ್ಟುವದ ಸುಡಲುಂಟೆ ?
ಜ್ಞಾನಾಗ್ನಿಯಲ್ಲಿ ದಗ್ಧವಾದ ಪರಮಶಿವಯೋಗಿಗೆ
ಹುಟ್ಟು ಹೊಂದೆಂಬ ಉಭಯ ಜಡತೆಯುಂಟೆ ?
ಅದೆಂತೆಂದಡೆ:
"ದಗ್ಧಸ್ಯ ದಹನಂ ನಾಸ್ತಿ ಪಾಕಸ್ಯ ಪಚನಂ ನ ಹಿ।
ಜ್ಞಾನಾಗ್ನಿರ್ದಗ್ಧದೇಹಸ್ಯ ನ ಚ ದಾಹೋ ನ ಚ ಕ್ರಿಯಾ॥"
ಎಂದುದಾಗಿ –
ನಮ್ಮ ಗುಹೇಶ್ವರಲಿಂಗವನೊಡಗೂಡಿ, ಎರಡಳಿದು ನಿಂದ,
ಮಹಾಮಹಿಮಂಗೆ ಪರಿಭವವಿಲ್ಲ ಕಾಣಿರೊ. ॥೫೭॥

೭೫೨

ಅಣುವಿಂಗೆ ಅಣು ಮಹತ್ತಿಂಗೆ ಮಹತ್ತು ಆದಲ್ಲಿ
ಮರದೊಳಗಣ ಪತ್ರ – ಫಲಂಗಳು
ಕಾಲವಶದಲ್ಲಿ ತೋರುವಂತೆ
ಹರನೊಳಗಣ ಲೀಲಾಪ್ರಕೃತಿಸ್ವಭಾವ
ಹರಲೀಲಾವಶದಲ್ಲಿ ತೋರುವುದು
ಶಿವನೆ ಚೈತನ್ಯಾತ್ಮನು ಚಿತ್‌ಸ್ವರೂಪನೆಂದರಿಯಬಲ್ಲರೆ
ಭಿನ್ನವೆಲ್ಲಿಯದೊ ಗುಹೇಶ್ವರಾ. ॥೫೮॥

೭೫೩

ಅತ್ತಲಿಂದ ಒಂದು ಪಶುವು ಬಂದು,
ಇತ್ತಲಿಂದ ಒಂದು ಪಶುವು ಬಂದು,

ಒಂದರ ಮೋರೆಯನೊಂದು ಮೂಸಿ ನೋಡಿದಂತೆ,
ಗುರುವು ಗುರುವಿನೊಳಗೆ ಸಂಬಂಧವಿಲ್ಲ ಶಿಷ್ಯರು ಶಿಷ್ಯರೊಳಗೆ ಸಂಬಂಧವಿಲ್ಲ,
ಭಕ್ತರಲಿ ಭಕ್ತರಲಿ ಸಂಬಂಧವಿಲ್ಲ.
ಈ ಕಲಿಯುಗದೊಳಗುಪದೇಶವ ಮಾಡುವ ಹಂದಿಗಳಿರಾ ನೀವು ಕೇಳಿರೊ,
ಗಂಡಗೆ ಗುರುವಾದಡೆ ಹೆಂಡತಿಗೆ ಮಾವನೆ ?
ಹೆಂಡತಿಗೆ ಗುರುವಾದಡೆ ಗಂಡಂಗೆ ಮಾವನೆ ?
ಗಂಡ ಹೆಂಡತಿಗೆ ಗುರುವಾದಡೆ ಇವರಿಬ್ಬರೇನು ಒಡಹುಟ್ಟಿದರೆ ?
ಈ ಭೇದವನರಿಯದೆ ದೀಕ್ಷೆ ಕಾರಣವ ಮಾಡುವಾತ ಗುರುವಲ್ಲ.
ಈ ಕಳೆಯ ಕುಲವನರಿಯದಾತ ಶಿಷ್ಯನಲ್ಲ.
ಈ ಭೇದವನರಿದು ಕಾರಣವ ಮಾಡುವ ಗುರುಶಿಷ್ಯ ಸಂಬಂಧವೆಲ್ಲ
ಉರಿ ಕರ್ಪುರ ಸಂಯೋಗದಂತಹುದು ಕಾಣಾ ಗುಹೇಶ್ವರಾ. ॥೫೯॥

೭೫೪

ಅದೃಷ್ಟಕರಣದ ಮೇಲಣ ಪೂರ್ವಾಶ್ರಯವ ಕಳೆದು
ಗುರುವಿನ ಹಸ್ತ ಮುಟ್ಟಿತ್ತೆಂಬ ಸಂದಣಿಯಲ್ಲಿ ಹೋಗದು.
ಪಂಚೇಂದ್ರಿಯ ಲಿಖಿತವ ತೊಡೆದು, ಲಿಂಗಲಿಖಿತವ ಬರೆವುದು
ಶಿಷ್ಯನ ಕೈಯಲ್ಲಲ್ಲದೆ ಗುರುವಿನ ಕೈಯಲಾಗದು.
ಭವಿ ಮಾಡುವ ಬೋನವ,
ಭಕ್ತ ಕಾಣದ ಹಾಗೆ ಅರ್ಪಿಸುವ ಭೇದವರಿದು,
ಪ್ರಸಾದದ ಪೂರ್ವಾಶ್ರಯವ ಕಳೆದು,
ರೂಪಿಸಬಲ್ಲೆವೆಂದಡೆ ಹರಿಯದು.
ಗುರುವಿಲ್ಲದ ಶಿಷ್ಯ ಶಿಷ್ಯನಿಲ್ಲದ ಗುರು–
ಇಂತೀ ಒಂದಕ್ಕೊಂದು ಇಲ್ಲದೆ
ಗುಹೇಶ್ವರಲಿಂಗದಲ್ಲಿ ಸಹಜದುದಯವಾದ
ನಮ್ಮ ಚನ್ನಬಸವಣ್ಣಂಗೆ ನಮೋ ನಮೋ ಎಂಬೆನು. ॥೬೦॥

೭೫೫

ಅದ್ವೈತವೆಂಬ ಶಿಶುವೆನ್ನ ಕರಸ್ಥಲವ ಸೋಂಕಲೊಡನೆ
ಎನ್ನ ತನ್ನಂತೆ ಮಾಡಿತ್ತಾಗಿ,
ಎನ್ನ ನಾನೆಂಬ ವಿಚಾರವು ಅರತು ಹೋಯಿತ್ತು ಕೇಳಾ.
ಮತ್ತೆ ಅನ್ಯವಿಚಾರವನೆಂತೂ ಅರಿಯೆನು.

ಎನ್ನ ಪೂರ್ವಾಪರವ ನಿಮ್ಮಿಂದಲರಿಯಲೆಂದು ಬಂದು
ನಿಮ್ಮ ಮರೆಹೊಕ್ಕೆನಾಗಿ,
ಸಂಗನಬಸವಣ್ಣನ ಮಹಿಮೆಯ ನಾನೆತ್ತ ಬಲ್ಲೆನು ?
ಗುಹೇಶ್ವರನ ಸಾಕ್ಷಿಯಾಗಿ
ಸಂಗನಬಸವಣ್ಣ ನಿನ್ನ ಅಂತರಂಗದೊಳಗೆ ಬೆಳಗುತ್ತೈದಾನೆ.
ಎನಗೊಮ್ಮೆ ಬಸವಣ್ಣನ ಘನವ ತಿಳುಹಿ ಕೊಡಾ ಚೆನ್ನಬಸವಣ್ಣಾ. ||೬೧||

೭೫೬

ಅಧರ ತಾಗಿದ ರುಚಿಯ, ಉದರ ತಾಗಿದ ಸುಖವ,
ಲಿಂಗಾರ್ಪಿತವ ಮಾಡಿದಡೆ ಕಿಲ್ಬಿಷ ನೋಡಿರೆ.
ಓಗರ ಪ್ರಸಾದವಲ್ಲ; ಪ್ರಸಾದ ಅರ್ಪಿತವಲ್ಲ.
ಇದನರಿದ ಶರಣಂಗೆ ಆಚಾರವಿಲ್ಲ, ಆಚಾರವಿಲ್ಲದ ಶರಣಂಗೆ ಲಿಂಗವಿಲ್ಲ.
ಲಿಂಗವಿಲ್ಲದ ಶರಣನ ನಿಲವು;
ಶಿವಸಂಪತ್ತಿನಲಾದ ಉದಯ, ವಿಪರೀತ ಸುಳುಹು !
ಪ್ರಕಟಸಂಸಾರದ ಬಳಕೆಯ ಹೊಡಕಟ್ಟಿ ಹಾಯ್ದು
ನಿಬ್ಬೆರಗು ಎಸೆವುದು ಅರಿವಿನ (ಎರವಿನ?) ಘಟದಲ್ಲಿ !
ಅರ್ಪಿಸಿದ ಪ್ರಸಾದವನು ಭೇದದಿಂದ ರುಚಿಸುವನಲ್ಲ ಕೇಳಿರಯ್ಯಾ.
ದಿಟವ ಬಿಟ್ಟು ಸಟೆಯಲ್ಲಿ ನಡೆಯ ನೋಡಾ.
ಇಲ್ಲದ ಲಿಂಗವನುಂಟುಮಾಡಿ ಪೂಜಿಸುವ,
ಬರಿಯ ಬಣ್ಣಕರೆಲ್ಲ ನೀವು ಕೇಳಿರೆ.
ನೀವು ಪೂಜಕರಪ್ಪಿರಲ್ಲದೆ,
ಗುಹೇಶ್ವರಲಿಂಗವಿಲ್ಲೆಂಬ ಶಬುದ ಸತ್ತು ಹುಟ್ಟುವರಿಗೆಲ್ಲಿಯದೊ ? ||೬೨||

೭೫೭

ಅನಂತಕೋಟಿ ಪ್ರಕಾಶವೆಂದು ಗಣಿಸಬಾರದ ಬ್ರಹ್ಮದಾ ಬೆಳಗು,
ನೋಡಬಾರದ ಘನವು ತೆರಹಿಲ್ಲದ ಬೆಳಗು, ಮಹಾಬೆಳಗು !
ತನ್ನಿಂದ ತಾನಾದ ಸ್ವಯ ಸುಖದ ನಿಜ, ನಿತ್ಯ ನಿಜ;
ರೂಪು ನಿರಂಜನ, ನಿಗಮಕ್ಕತೀತ !
ಹರಿಯಜರಿಗೆಟುಕದ ಜ್ಯೋತಿರ್ಮಯ ತಾನೆ
ಲೀಲೆಗೆ ಮೂಲವಾದ.
ಗುಹೇಶ್ವರಲಿಂಗ ಘನಕ್ಕೆ, ಘನವಾದುದು ! ||೬೩||

೭೫೮

ಅನಾದಿಗಣನಾಥನ ಶಿಷ್ಯನು ಆದಿಗಣನಾಥನು.
ಆದಿಗಣನಾಥನ ಶಿಷ್ಯನು ಅಧ್ಯಾತ್ಮಗಣನಾಥನು.
ಅಧ್ಯಾತ್ಮಗಣನಾಥನ ಶಿಷ್ಯನು ಆತ್ಮಗಣನಾಥನು.
ಆತ್ಮಗಣನಾಥನ ಶಿಷ್ಯನು ವ್ಯೋಮಸಿದ್ಧಗಣನಾಥನು
ವ್ಯೋಮಸಿದ್ಧಗಣನಾಥನ ಶಿಷ್ಯನು ಬಸವನೆಂಬ ಗಣನಾಥನು.
ಬಸವನೆಂಬ ಗಣನಾಥನ ಶಿಷ್ಯನು ಅನಿಮಿಷನೆಂಬ ಗಣನಾಥನು.
ಅನಿಮಿಷನೆಂಬ ಗಣನಾಥನ ಶಿಷ್ಯನು ಅಲ್ಲಮಪ್ರಭುವೆಂಬ ಗಣನಾಥನು.
ಇಂತು ಅನಾದಿವಿಡಿದು ಬಂದ ಅನುಪಮಲಿಂಗವು,
ಗುಹೇಶ್ವರನೆಂಬ ಹೆಸರನೊಳಕೊಂಡು,
ಎನ್ನ ಕರಸ್ಥಲಕ್ಕೆ ಸಾಧ್ಯವಾಯಿತ್ತು ಕಾಣಾ ಸಿದ್ಧರಾಮಯ್ಯಾ. ||೬೪||

೭೫೯

ಅನಾದಿಪುರುಷ ಬಸವಣ್ಣಾ,
ಕಾಲ ಮಾಯೆಗಳೆರಡೂ ನಿಮ್ಮ ಮುಂದಿರ್ದು,
ನಿಮ್ಮ ಕಾಣೆವೆನುತ್ತಿಹವು.
ಆದಿಪುರುಷ ಬಸವಣ್ಣಾ;
ಸುರಾಸುರರು ನಿಮ್ಮ ಮುಂದಿರ್ದು ನಿಮ್ಮ ಕಾಣೆವೆನುತ್ತಿಹರು.
ನಾದಪುರುಷ ಬಸವಣ್ಣಾ,
ನಾದ ಮಂತ್ರಗಳು ಪಂಚಮಹಾವಾದ್ಯಂಗಳು
ನಿಮ್ಮ ಮುಂದಿರ್ದು ನಿಮ್ಮ ಕಾಣೆವೆನುತ್ತಿಹವು.
ವೇದಪುರುಷ ಬಸವಣ್ಣಾ,
ವೇದಶಾಸ್ತ್ರಾಗಮ ಪುರಾಣಂಗಳು ನಿಮ್ಮ ಮುಂದಿರ್ದು ನಿಮ್ಮ ಕಾಣೆವೆನುತ್ತಿಹವು.
ಆಗಮ್ಯಪುರುಷ ಬಸವಣ್ಣಾ,
ಅಂಗಾಲ ಕಣ್ಣವರು ಮೈಯೆಲ್ಲ ಕಣ್ಣವರು ನಂದಿವಾಹನರು
ಗಂಗೆವಾಳುಕರೆಲ್ಲರು ನಿಮ್ಮ ಮುಂದಿರ್ದು ನಿಮ್ಮ ಕಾಣೆವೆನುತ್ತಿಹರು.
ಅಗೋಚರಪುರುಷ ಬಸವಣ್ಣಾ,
ಈ ಗೋಚರಿಸಿದ ಮನುಮುನಿ ದೇವದಾನವ ಮಾನವರೆಲ್ಲರು
ನಿಮ್ಮ ಮುಂದಿರ್ದು ನಿಮ್ಮ ಕಾಣೆವೆನುತ್ತಿಹರು.
ಅಪ್ರಮಾಣಪುರುಷ ಬಸವಣ್ಣ,
ಈ ಪ್ರಮಾಣರೆಲ್ಲರು ನಿಮ್ಮ ಮುಂದಿರ್ದು ನಿಮ್ಮ ಕಾಣೆವೆನುತ್ತಿಹರು.

ಸರ್ವಜ್ಞಪುರುಷ ಬಸವಣ್ಣಾ,
ಈ ಸರ್ವರು ನಿಮ್ಮ ಬಳಸಿರ್ದು ನಿಮ್ಮ ಕಾಣೆವೆನುತ್ತಿಹರು.
ಇಂತೀ ಸರ್ವಪ್ರಕಾರದವರೆಲ್ಲರೂ
ನಿಮ್ಮ ಸಾಧಿಸಿ ಭೇದಿಸಿ ಪೂಜಿಸಿ ತರ್ಕಿಸಿ ಹೊಗಳಿ ಕಾಣದೆ
ನಿಮ್ಮಿಂದವೆ ಉತ್ಪತ್ತಿ ಸ್ಥಿತಿಲಯಂಗಳಾಗುತ್ತಿಹರು.
ಅದು ಕಾರಣ,–ನಮ್ಮ ಗುಹೇಶ್ವರಲಿಂಗದಲ್ಲಿ ಭಕ್ತಿವಡೆದ
ಅನಂತ ಭಕ್ತರೆಲ್ಲ
ಬಸವಣ್ಣ ಬಸವಣ್ಣ ಬಸವಣ್ಣ ಎನುತ್ತ ಬದುಕಿದರಯ್ಯಾ. ||೬೫||

೭೬೦

ಅನಾದಿಯ ಮಗನು ಆದಿ, ಆದಿಯ ಮಗನತೀತ.
ಅತೀತನ ಮಗನು ಆಕಾಶ,. ಆಕಾಶನ ಮಗನು ವಾಯು.
ವಾಯುವಿನ ಮಗನಗ್ನಿ. ಅಗ್ನಿಯ ಮಗನು ಅಪ್ಪು,
ಅಪ್ಪುವಿನ ಮಗನು ಪೃಥ್ವಿ.
ಪೃಥ್ವಿಯಿಂದ ಸಕಲ ಜೀವರೆಲ್ಲರು ಉದ್ಭವಿಸಿದರು ಗುಹೇಶ್ವರಾ. ||೬೬||

೭೬೧

ಅನಾದಿಯಲೊಬ್ಬ ಶರಣ;
ಆಹ್ವಾನ ವಿಸರ್ಜನವಿಲ್ಲದ ಪರತತ್ವವ ಸ್ಥಾಪಿಸಿ ಪ್ರತಿಷ್ಠೆಯ ಮಾಡುವಲ್ಲಿ
ಷಡುವರ್ಣಾತ್ಮಕ ಮೃಗಿ ಹುಟ್ಟಿದಳು ನೋಡಾ !
ಆ ಮೃಗಿಯೊಳು ಪಂಚಾಂಗ ಪಂಚತಂಡದವರೆಲ್ಲ ಹುಟ್ಟಿ ವರ್ತಿಸಿ ಲಯವಾಗಿ,
ಮತ್ತೆ ಪಲ್ಲವಿಸುತಿರ್ದರು ನೋಡಾ !
ಆ ಪರತತ್ವದ ಲೀಲೆಯನು ಆ ಶರಣನೆ ಬಲ್ಲ ಗುಹೇಶ್ವರಾ. ||೬೭||

೭೬೨

ಅನಾದಿ ಶರಣನ ಹೃತ್ಕಮಲ ಮಧ್ಯದ
ತೇಜೋಮಯವನೇನೆಂದುಪಮಿಸಯ್ಯಾ ?
ಜಲವೆ ಪಾದಶಿಲೆ. ಪೃಥ್ವಿಯೆ ಪಿಂಡಿಗೆ
ಆಕಾಶವೆ ಲಿಂಗ. ಸಪ್ತಸಮುದ್ರಗಳೆ ಪಂಚಾಮೃತ.
ಮೇಘವೆ. ಅಗ್ಘವಣಿಯ ಬಿಂದಿಗೆ. ಮಳೆಗಾಲವೆ ಮಜ್ಜನ.
ಚಂದ್ರಮನೆ ನೊಸಲ ಗಂಧ. ನಕ್ಷತ್ರವೆ ಅಕ್ಷತೆ.

ತರುಮರಾದಿಗಳೆ ಪತ್ರೆಪುಷ್ಪ, ಮೊಳಗೆ ಪಂಚಮಹಾವಾದ್ಯ !
ಮಾಗಿಯೆಂಬ ಪರಿಯಾಣವ ಬೆಳಗಿ, ಬೇಸಗೆಯೆಂಬ ಓಗರವ ಗಡಣಿಸಿ
ಸರ್ವಪರಿಮಳವೆಂಬ ತುಪ್ಪವನೆರೆದು, ಪರವೆಂಬ ಮೇಲೋಗರವನಿಕ್ಕಿ
ಬೆಳಗು ಕತ್ತಲೆಯೆಂಬ ಕನ್ನಡವ ಕಟ್ಟಿ,
ಲಿಂಗವ ಆರೋಗಣೆಯ ಮಾಡಿಸಿ
ಸುಜ್ಞಾನದಲ್ಲಿ ಕೈಗೆರೆದು
ಭಾಪವೆಂಬ ವೀಳೆಯವ ಕೊಟ್ಟು,
ಅನು ನೀನೆಂಬ ಅನುಲೇಪಗಂಧವ ಪೂಸಿ
ವಾಯುವೆಂಬ ವಸ್ತ್ರವನುಡಿಸಿ,
ಗುಹೇಶ್ವರನೆಂಬ ಲಿಂಗ ಪರಿಪೂರ್ಣವಾಗಿದ್ದ ಬಳಿಕ,
ಮಜ್ಜನಕ್ಕೆರೆವ ಠಾವಾವುದೈ ಸಂಗನಬಸವಣ್ಣಾ ? ॥೬೮॥

೭೬೩

ಅನುಭವ ಅನುಭವವೆಂಬ ಅಣ್ಣಗಳು ನೀವು ಕೇಳಿರೆ,
ಅನುಭವವೆಂಬುದೊಂದು ಎತ್ತು, ಕೆಟ್ಟಿತ್ತು.
ಎತ್ತು ಗೇಣುದ್ದ, ಕೊಂಬು ಮೊಳದುದ್ದ.
ಕೆಟ್ಟೆಂಟು ದಿನ, ಕಂಡು ಹದಿನಾರುದಿನ
ನಿನ್ನೆ ಮೆಟ್ಟಿದ ನಾಟಿಯ ಮೊನ್ನೆ ಮೇವುದ ಕಂಡೆ
ಗುಹೇಶ್ವರನೆಂಬ ಎತ್ತು ನಿಮ್ಮೊಳಗೈದಾನೆ; ಅರಸಿಕೊಳ್ಳಿರೊ. ॥೬೯॥

೭೬೪

ಅನುವನರಿಯದೆ, ಆದಿಯ ವಿಚಾರಿಸದೆ
ಅನಾದಿಯಲ್ಲಿ ತಾನೆರೆಂಬುದ ನೋಡದೆ
ಸ್ತೋತ್ರವ ಮಾಡಿ ಫಲವೇನು ?
'ನಿಶ್ಶಬ್ದಂ ಬ್ರಹ್ಮ ಉಚ್ಯತೇ' ಎಂಬ ಘನವು
ಹೊಗಳತೆಗೆ ಸಿಕ್ಕುವುದೆ ಎಲೆ ಮರುಳುಗಳಿರಾ ?
ಅನಾದಿಯಲ್ಲಿ ಬಸವಣ್ಣನು ಏಳುನೂರೆಪ್ಪತ್ತು ಅಮರಗಣಂಗಳು ಸಹಿತ
ಮರ್ತ್ಯಕ್ಕೆ ಬಂದನೊಂದು ಕಾರಣದಲ್ಲಿ.
ಬಂದ ಮಣಿಹ ಪೂರೈಸಿತ್ತು – ಸಂದ ಪುರಾತರೆಲ್ಲರೂ ಕೇಳಿ,
ಇಂದು ನೀವೆಲ್ಲರು ನಿಮ್ಮ ನೀವು ತಿಳಿದು ನೋಡಿ
ನಿಜವನೈದುವುದು.
ಇನ್ನು ನಮ್ಮ ಗುಹೇಶ್ವರಲಿಂಗಕ್ಕೆ
ಸುರಾಳದ ಸುಳುಹಿಲ್ಲ. ॥೭೦॥

೭೬೫

ಅನುಭವ ಪ್ರಾಣಲಿಂಗ ಪರಾತ್ಪರವೆಂದರಿದು,
"ಅಣೋರಣೀಯಾನ್ ಮಹತೋ ಮಹೀಯಾನ್"
ಎಂದು ಅಣುರೇಣು ತೃಣಕಾಷ್ಠದೊಳ್ಕೂಡಿ,
"ತೇನ ವಿನಾ ತೃಣಾಗ್ರಮಪಿ ನ ಚಲತಿ" –
ಎಂದು ಪರಿಪೂರ್ಣ ಸದಾಶಿವನೆಂದರಿದು –
ಇಂತು ಕ್ಷಣವೇದಿ ಅಂತರಂಗವ ವೇದಿಸಲ್ಕೆ, ಅಗಣಿತ ಅಕ್ಷೇಶ್ವರ ತಾನೆಂದು
ಪ್ರಣಮಪ್ರಭೆಯ ಮೇಲಣ ಪರಂಜ್ಯೋತಿ ತಾನೆಂದರಿದ ಕಾರಣ
ಗುಹೇಶ್ವರಾ ನಿಮ್ಮ ಶರಣನುಪಮಾತೀತನು. ॥೭೦॥

೭೬೬

ಅನ್ನಬರ ಹಾಗೆನ್ನದಿರು ಸಂಗನಬಸವಣ್ಣಾ.
ನಿನಗೆ ಬೇರೆ ಅಡಗುವ ಕುರುಹೆಂಬುದೊಂದೊಡಲುಂಟು
ಎನಗೆ ಅಂಗೈಯ ನಾಮ, ಕಾಯವೆಂಬ ಕದಳಿ,
ಗುಹೇಶ್ವರನೆಂಬ ಭ್ರಮೆ ಬಿಡದು. ॥೭೨॥

೭೬೭

ಅನ್ನವನಿಕ್ಕಿ ನನ್ನಿಯ ನುಡಿದು
ಅರವಟ್ಟಿಗೆಯನಿಕ್ಕಿ ಕೆರೆಯ ಕಟ್ಟಿಸಿದಡೆ
ಮರಣದಿಂದ ಮೇಲೆ ಸ್ವರ್ಗ ಉಂಟಲ್ಲದೆ
ಶಿವನ ನಿಜವು ಸಾಧ್ಯವಾಗದು.
ಗುಹೇಶ್ವರನನರಿದ ಶರಣಂಗೆ ಆವ ಫಲವೂ ಇಲ್ಲ. ॥೭೩॥

೭೬೮

ಅಭ್ಯಾಸದ ಮಾತಲ್ಲ, ಶ್ರೋತ್ರದ ಸುಖವಲ್ಲ,
ಶಾಸ್ತ್ರದ ಅನುಭಾವದ ಮಾತಲ್ಲ.
ಒಳಗಣ ಮಾತಲ್ಲ ಹೊರಗಣ ಮಾತಲ್ಲ.
ಇದರಂಗ (ತು?) ವನರಿಯರೆ,
ಅನುಭಾವವ ಮಾಡಿ ಫಲವೇನಯ್ಯಾ ?
ಗುಹೇಶ್ವರಲಿಂಗವು ಉಪಮಾತೀತ ನೋಡಯ್ಯಾ ಸಿದ್ಧರಾಮಯ್ಯ ! ॥೭೪॥

೭೭೯

ಅಭ್ಯಾಸವ ಮಾಡುವ ಕೋಲಿಂಗೆ ಶರಣೆಂದಡೆ
ಮುಂದಣ ಬವರಕ್ಕಾಗಬಲ್ಲುದೆ ಅಯ್ಯಾ ?
ಇಷ್ಟಲಿಂಗವೆಂದು ಮುಟ್ಟಿ ಪೂಜಿಸುತ್ತಿದ್ದಡೆ
ಮುಂದಣ ಶಂಕೆಗಿನ್ನೆಂತೊ ?
ಲಿಂಗವೆಂದಡೆ ನಿಸ್ಸಂಗದಲಿದೆ,
ಜಂಗಮವೆಂದಡೆ ಆಶ್ರಯದಲ್ಲಿದೆ
ಈ ಲಿಂಗಜಂಗಮವನೊಂದೆಂದಡೆ ಮುಂದಣ ಲಯಕ್ಕಿನ್ನೆಂತೊ ?
ಎಲೆ ಗುಹೇಶ್ವರಾ,
ನಿಮ್ಮ ಶರಣ ಚತುರ್ವಿಧಪದವಿಗಳಿಗೆ ಹೊರಗು. ॥೭೫॥

೭೮೦

ಅಮರದ ಹೊಲಬನರಿಯದೆ ಜಗವೆಲ್ಲ ಬರಡಾಯಿತ್ತು.
ಅಂಗದ ಹೊಲಬನರಿಯದೆ ಯೋಗಿಗಳೆಲ್ಲ ಭಂಗಿತರಾದರು
ಸಂಗದ ಹೊಲಬನರಿಯದೆ ಶರಣರು ಭಂಗಿತರಾದರು
ಲಿಂಗದ ಹೊಲಬನರಿಯದೆ ಭಕ್ತ ಶೀಲವಂತನಾದ.
ಆದಿ ಮಧ್ಯಾವಸಾನದಲ್ಲಿ ಗುಹೇಶ್ವರನೆಂಬ ಲಿಂಗವು
ಅರಿವಿನ ಮರೆಯಲ್ಲಿಹುದನಾರೂ ಅರಿಯರಲ್ಲಾ ? ॥೭೬॥

೭೮೧

ಅಮೃತಕಲೆಯ ಸೂಡಿದವ ಅಂಬಲಿಯನುಂಬನೆ ?
ಶಿವನಾರು ? ಮಾಂಸನಾರು ?
ಚೋಳಿಯಕ್ಕನೆಂಜಲ, ಹಸಿದುಂಡನೆನಬಹುದೆ ?
ಹಸುಳೆಯ ಕೈಯ ಹಾಲನಾರು ಕಿತ್ತುಕೊಂಬರು ?
ಗುಹೇಶ್ವರಾ, ನೀನು ಭಕ್ತಿಪ್ರಿಯನೆಂಬುದ
ಮೂರು ಲೋಕವರಿಯದೆ ? ॥೭೭॥

೭೮೨

ಅಯ್ಯ, ಅನುಭಾವವಿಲ್ಲದ ವಿರಕ್ತಿ ಆಯುಧವಿಲ್ಲದ ವೀರನಂತೆ.
ಅನುಭಾವವಿಲ್ಲದ ಷಟ್‌ಸ್ಥಲವು ಕಣ್ಣಿಲ್ಲದ ಕುರುಡನಂತೆ.

ಅನುಭಾವವಿಲ್ಲದ ಜಂಗಮವು ಕಾಲಿಲ್ಲದ ಹೆಳವನಂತೆ.
ಅನುಭಾವವಿಲ್ಲದ ಶಿವಪೂಜೆಯ ಎಷ್ಟು ಮಾಡಿದಡೆಯು ಪ್ರಯೋಜನಕ್ಕೆಬಾರದು.
ಅನುಭಾವವಿಲ್ಲದವನ ಲಿಂಗಪೂಜೆ ಬರಿಕೈಯಲ್ಲಿ ಹುಡಿಮಣ್ಣ ಹೊಯ್ದುಕೊಂಡಂತೆ.
ಇದು ಕಾರಣ:
ಭಕ್ತಿಗೆ ವಿರಕ್ತಿಗೆ ಮುಕ್ತಿಗೆ ವೀರಶೈವಕ್ಕೆ ಜಂಗಮಕ್ಕೆ ಅನುಭಾವವಿರಬೇಕು.
ಅನುಭಾವವಿಲ್ಲದ ವಿರಕ್ತನಲ್ಲಿ ಪಾದೋದಕ–ಪ್ರಸಾದವ ಕೊಳಲಾಗದು.
ಅನುಭಾವವುಳ್ಳ ಆಚಾರಸಂಪನ್ನನಾದ ಸದ್ಭಕ್ತನಲ್ಲಿ
ಅನಾದಿ ಪಾದೋದಕ–ಪ್ರಸಾದವ ಕೊಂಡವರು ಪರಮಮುಕ್ತರಾದರಯ್ಯಾ
ನಿಜಗುರು ಗುಹೇಶ್ವರಲಿಂಗದಲ್ಲಿ ಚೆನ್ನಬಸವಣ್ಣಾ. ॥೭೮॥

೭೭೩

ಅಯ್ಯ ಅಷ್ಟತನುವಿನ ಭ್ರಷ್ಟಮದಂಗಳ ತೂರಿ,
ಅಷ್ಟಭೋಗವನಳಿದು, ಅಷ್ಟೈಶ್ವರ್ಯಗಳ ನೀಗಿ, ಅಷ್ಟಭಕ್ತಿಯನರಿದು,
ಅಷ್ಟಾವರಣವ ತಿಳಿದು, ಅಷ್ಟವಿಧಸಕೀಲವ ಭೇದಿಸಿ ನೋಡಿ,
ಅಷ್ಟಾಚಾರಗಳ ಕಂಡು, ನಿಷ್ಠೆ ನಿಜದಲ್ಲಿ ನಿಂದು,
ಸಗುಣಾನಂದಲೀಲಾಮೂರ್ತಿಯಾಗಿ ಪ್ರಜ್ವಲಿಸುವ ಸದ್ಭಕ್ತ ಶರಣನಂತರಂಗದಲ್ಲಿ
ಪರಿಪೂರ್ಣಲೀಲೆಯಿಂ ಮೂವತ್ತಾರು ತತ್ವಂಗಳನೊಳಕೊಂಡು,
ಇಪ್ಪತ್ತು ನಾಲ್ಕು ಸ್ಥಲಂಗಳ ಗರ್ಭೀಕರಿಸಿಕೊಂಡು
ಸಾವಿರದೇಳುನೂರ ಇಪ್ಪತ್ತೆಂಟು ಮಂತ್ರಮಾಲೆಗಳ ಪಿಡಿದು,
ಇಪ್ಪತ್ತುನಾಲ್ಕು ಸಕೀಲ ಗರ್ಭದಿಂ
"ಭಕ್ತದೇಹಿಕದೇವಾನಾಂ ದೇವದೇಹಿಕ ಭಕ್ತಯೋಃ"
ಎಂಬ ವಾಂಛೆಯಿಂ ಕ್ಷೀರದೊಳು ಘೃತವಡಗಿದಂತೆ
ಪಂಚಾಚಾರಮೂರ್ತಿ ಆಚಾರಲಿಂಗವಾಗಿ ನೆಲಸಿರ್ಪುದು ನೋಡ !
ಗುಹೇಶ್ವರಲಿಂಗವು ಚೆನ್ನಬಸವಣ್ಣ. ॥೭೯॥

೭೭೪

ಅಯ್ಯ ! ಆಗಮಿಕನಲ್ಲಿ ವೇದಪಾಠಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ತರ್ಕನಲ್ಲ ವ್ಯಾಕರಣನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಶಾಸ್ತ್ರಜ್ಞನಲ್ಲ ಪುರಾಣಿಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ವಾದಿಯಲ್ಲ ಉಪನೀತಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಮಾತಿನವನಲ್ಲ ಮಥನದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ

ನೀತಿಯವನಲ್ಲ ಖ್ಯಾತಿಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ರತಿಯವನಲ್ಲ ವಿರತಿಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಹೆಣ್ಣು ರೂಪನಲ್ಲ ಗಂಡು ರೂಪನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ನಾಮದವನಲ್ಲ ಸೀಮೆಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಆಕ್ರಿಯದವನಲ್ಲ ದುಃಕ್ರಿಯದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಶ್ವಾನಜ್ಞಾನಿಯಲ್ಲ ಕುಕ್ಕಟಜ್ಞಾನಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಅಶನಿಯಲ್ಲ ವ್ಯಸನಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಇಂತು ಉಭಯ ಭಿನ್ನನಾಮವಳಿದ ಸಂಗನ ಬಸವಣ್ಣನ ಕರ ನಯನ ಮುಖದಲ್ಲಿ
ಬೆಳಗುವ ಚಿಜ್ಜ್ಯೋತಿ ತಾನೆ ನೋಡ ! ನಿರವಯಶೂನ್ಯಲಿಂಗಮೂರ್ತಿ ಚೆನ್ನಬಸವಣ್ಣ.
॥೮೦॥

೭೭೫

ಅಯ್ಯ, ಆಚಾರವಿಲ್ಲದ ಜಂಗಮದಲ್ಲಿ ಪಾದೋದಕಪ್ರಸಾದವ ಕೊಳಲಾಗದು.
ಆಚಾರವಿಲ್ಲದ ಜಂಗಮ[ವ] ದೇವರೆಂದು ಭಾವಿಸಲಾಗದು.
'ಆಚಾರಶೂನ್ಯಂ ಚ ಭೂತಪ್ರಾಣೀ ಎಂದುದಾಗಿ
ಆಚಾರವಿಲ್ಲದ ಅನಾಮಿಕರ ಕೈಯಲ್ಲಿ
ಪಾದೋದಕ ಪ್ರಸಾದ ಉಪದೇಶವ ಕೊಂಡವಂಗೆ
ಅಘನಾಸ್ತಿಯಾಗದು, ಮುಂದೆ ಅಘೋರನರಕ ತಪ್ಪದು
ಕಾಣಾ ಗುಹೇಶ್ವರಾ. ॥೮೧॥

೭೭೬

ಅಯ್ಯ ಉಭಯ ಭಿನ್ನವರ್ತನಾಗುಣಂಗಳ
ತನ್ನ ಮೂಲ ಚಿತ್ಸ್ವರೂಪವಾದ ಪರಿಪೂರ್ಣ ಮಹಾಜ್ಞಾನ ಪ್ರಕಾಶದ ಬಲದಿಂ
ಜಳ್ಳುಮಾಡಿ ತೂರಿ, ತನ್ನನಾದಿಸನ್ಮಾರ್ಗವ ತಿಳಿದು,
ಆ ಸನ್ಮಾರ್ಗದೊಳಗೆ ನಿರಾಭಾರಿ ವೀರಶೈವ ಅನಾದಿಶರಣಸ್ವರೂಪವ ತಿಳಿದು,
ಆ ಶರಣನ ನಿಜಾಚರಣೆ ಸ್ವಸ್ವರೂಪದ ನಿಲುಕಡೆಯ
ಆ ಪರಿಪೂರ್ಣಜ್ಞಾನಪ್ರಕಾಶದೊಳಗೆ ಮಹದರಿವ
ಸ್ವಾನುಭಾವದೃಕ್ಕಿನಿಂ ಕಂಡು, ಆ ಮಹದರಿವೆ ಗುರುವಾಗಿ,
ಆ ಪರಿಪೂರ್ಣಜ್ಞಾನವೆ ಶಿಷ್ಯನಾಗಿ, ಆ ಸ್ವಾನುಭಾವ ಪ್ರಕಾಶವೆ ಲಿಂಗವಾಗಿ,
ತಮ್ಮ ತಮ್ಮ ನಿಜ ಪ್ರಕಾಶಕ್ಕೆ ಪ್ರಭಾವಿಸುವ
ಪರಾತ್ಪರಂಜ್ಯೋತಿ ನಿರವಯ ಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು
ಸಂಗನ ಬಸವಣ್ಣನ ಅಷ್ಟದಳ, ಚೌದಳ, ಷಡ್ದಳ, ದಶದಳ, ದ್ವಾದಶದಳ.

ಷೋಡಶದಳ, ದ್ವಿದಳ, ಶತದಳ, ಸಹಸ್ರದಳ, ಲಕ್ಷದಳ, ಕೋಟಿದಳಂಗಳಿಂದ
ಸರ್ವಾಂಗದಿ ಶೋಭಿಸುವ ಅನಂತದಂಗಳದಲ್ಲಿ
ಅನಂತಕೋಟಿ ಸೂರ್ಯಚಂದ್ರಾಗ್ನಿ ಪ್ರಕಾಶಕ್ಕೆ ಮಿಗಿಲಾಗಿ [ಒಪ್ಪುತ್ತಿರ್ಪುದು]
ನೋಡ ! ಚೆನ್ನಬಸವಣ್ಣ ! ॥೮೨॥

೭೭೭

ಅಯ್ಯ ಎತ್ತಿದ (ಇಕ್ಕಿದ?) ಮಣಿ ಮುಕುಟದ ಮೇಲೆ
ಸುತ್ತಿದ ನಾಗಭೂಷಣದ ಪಡೆಯೊಂದು ಕೋಟಿ
ಶಿವನಿಪ್ಪ ನೆಲೆಯನಾರೂ ಅರಿಯರಯ್ಯ.
ಇಕ್ಕಿದ ಕರೋಟಿಮಾಲೆಯೊಳಗಿಪ್ಪ ರುದ್ರರು ಒಂದು ಕೋಟಿ
ಶಿವನಿಪ್ಪ ನೆಲೆಯನಾರೂ ಅರಿಯರಯ್ಯ.
ಇಕ್ಕಿದ ರುಂಡಮಾಲೆಯೊಳಗಿಪ್ಪ ಮುಂಡಧಾರಿಗಳು ಒಂದು ಕೋಟಿ
ಶಿವನಿಪ್ಪ ನೆಲೆಯನಾರೂ ಅರಿಯರಯ್ಯ.
ಉಟ್ಟ ಗಜಚರ್ಮದೊಳಗಿಪ್ಪ ಋಷಿಗಳು ಒಂದು ಕೋಟಿ
ಶಿವನಿಪ್ಪ ನೆಲೆಯನಾರೂ ಅರಿಯರಯ್ಯ.
ಖಟ್ವಾಂಗದೊಳಗಿಪ್ಪ ಮನುಮುನಿಗಳು ಒಂದು ಕೋಟಿ
ಶಿವನಿಪ್ಪ ನೆಲೆಯನಾರೂ ಅರಿಯರಯ್ಯ.
ಗಂಗೆ ಗೌರಿ ಭೃಂಗಿ ಮೊದಲಾಗಿ ಶಿವನಿಪ್ಪ ನೆಲೆಯನರಿಯರು,
ಗುಹೇಶ್ವರ ನಿಮ್ಮ ಶರಣ ಸಂಗನಬಸವಣ್ಣ ಬಲ್ಲ. ॥೮೩॥

೭೭೮

ಅಯ್ಯ ! ಏಕಮುಖನಲ್ಲ ದ್ವಿಮುಖನಲ್ಲ ನೋಡ !
ನಿರವಯಶೂನ್ಯಲಿಂಗಮೂರ್ತಿ.
ತ್ರಿಮುಖನಲ್ಲ ಚತುರ್ಮುಖನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಪಂಚಮುಖನಲ್ಲ ಷಣ್ಮುಖನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಸಪ್ತಮುಖನಲ್ಲ ಅಷ್ಟಮುಖನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ನವಮುಖನಲ್ಲ ದಶಮುಖನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಜೀವಾತ್ಮನಲ್ಲ ಅಂತರಾತ್ಮನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಜಾಗ್ರನಲ್ಲ ಸ್ವಪ್ನನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ವಿಶ್ವನಲ್ಲ ತೈಜಸನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಖೇಚರನಲ್ಲ ಭೂಚರನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಜಾರನಲ್ಲ ಚೋರನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಹಮ್ಮಿನವನಲ್ಲ ಬಿಮ್ಮಿನವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.

ಭುಕ್ತನಲ್ಲ ಮುಕ್ತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ–
ಇಂತು ಉಭಯವಳಿದ ಸಂಗನಬಸವಣ್ಣನ
ಬೆಳಗಿನೊಳಗೆ ಮಹಾ ಬೆಳಗಾಗಿರ್ಪುದು ನೋಡ ! ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೮೪॥

೭೭೯

ಅಯ್ಯ, ಒಂದು ಕೋಟಿ ವರುಷ ತಲೆ ಕೆಳಗಾಗಿ ತಪವ ಮಾಡಿದಕಿಂದಲು
ಒಂದು ದಿನ ಶಿವಭಕ್ತರಲ್ಲಿ ನಿರಹಂಕಾರವಾಗಿರ್ದಡೆ ಸಾಕು ನೋಡಾ.
ಒಂದು ಕೋಟಿ ವರುಷ ಊರ್ಧ್ವಮುಖವಾಗಿ ಸೂರ್ಯನ ನೋಡಿದ ಫಲವು
ಒಂದು ದಿನ ಸದಾಚಾರ ಸದ್ಧರ್ಮರಪ್ಪ ಶಿವಭಕ್ತರ ನೋಡಿದುದಕ್ಕೆ
ಸರಿಯಲ್ಲ ನೋಡಾ.
ಒಂದು ಕೋಟಿ ವರುಷ ಅಖಿಳ ದೇವತೆಗಳ ಸ್ತೋತ್ರವ ಮಾಡಿದ ಫಲವು
ಒಂದು ದಿನ ಶರಣರಿಗೆ ಶರಣು ಮಾಡಿದುದಕ್ಕೆ ಸರಿಯಲ್ಲ ನೋಡಾ.
ಒಂದು ಕೋಟಿ ವರುಷ ಅರವತ್ತಾರು ಕೋಟಿ ನದಿಗಳ ಮಿಂದು
ಮುಡಿಯಿಟ್ಟ ಫಲವು,
ಒಂದು ದಿನ ಸದ್ಭಕ್ತ–ಜಂಗಮ–ಶರಣಗಣ ತೀರ್ಥಕ್ಕೆ ಸರಿಯಲ್ಲ ನೋಡಾ.
ಒಂದು ಕೋಟಿ ವರುಷ ಚಾಂದ್ರಾಯಣವ್ರತ ಮೊದಲಾದ
ಸರ್ವವ್ರತಂಗಳ ನಡಸಿದ ಫಲವು
ಒಂದು ದಿನ ಗುರು–ಲಿಂಗ–ಜಂಗಮ–ಪ್ರಸಾದಕ್ಕೆ ಸರಿಯಲ್ಲ ನೋಡಾ.
ಒಂದು ಕೋಟಿ ವರುಷ ವೇದಾಗಮ ಪುರಾಣಶಾಸ್ತ್ರ ಮಂತ್ರಂಗಳ ಓದಿದ ಫಲವು
ಒಂದು ದಿನ ಶಿವಭಕ್ತಶರಣರ ಸಂಭಾಷಣಕ್ಕೆ ಸರಿಯಲ್ಲ ನೋಡಾ.
ಒಂದು ಕೋಟಿ ವರುಷ ಮಹಾಯೋಗವ ಮಾಡಿದ ಫಲವು
ಒಂದು ದಿನ ಶ್ರೀಗುರು–ಲಿಂಗ–ಜಂಗಮ ಧ್ಯಾನಕ್ಕೆ ಸರಿಯಲ್ಲ ನೋಡಾ.
ಒಂದು ಕೋಟಿ ವರುಷ ಷೋಡಶ ಮಹಾದಾನಂಗಳ ಮಾಡಿದ ಫಲವು
ಒಂದು ದಿನ ಸದ್ಧರ್ಮಿ ಶಿವಯೋಗಿಗೆ ನೀಡಿದ ತೃಪ್ತಿಯ ಮಾಡಿದುದಕ್ಕೆ
ಸರಿಯಲ್ಲ ನೋಡಾ.
ಅಖಿಳ ಕ್ರಿಯೆಗಳು ಲಿಂಗಜಂಗಮಾರ್ಚನೆ ಕ್ರಿಯೆಗಳೆಗೆ ಸರಿಯಲ್ಲ ನೋಡಾ.
ಯೋಗದ ಬಲದಿಂದ ಸಮಸ್ತ ಭೋಗವ ಪಡೆದ ಫಲವು
ಒಂದು ವೇಳೆ ಗುರು–ಲಿಂಗ–ಜಂಗಮಕ್ಕೆ ದೀರ್ಘದಂಡ ನಮಸ್ಕಾರವ ಮಾಡಿ
ಸನ್ನಿಧಿಯಲ್ಲಿ ಭೃತ್ಯನಾಗಿರ್ದುದಕ್ಕೆ ಸರಿಯಲ್ಲ ನೋಡಾ.
ಪ್ರಾಣನ ಬ್ರಹ್ಮರಂಧ್ರದಲ್ಲಿ ಬಿಡುವ ಯೋಗವು
ಪ್ರಾಣಲಿಂಗ ಸಂಬಂಧಕ್ಕೆ ಸರಿಯಲ್ಲ ನೋಡಾ [ಗುಹೇಶ್ವರ]. ॥೮೫॥

೭೮೦

ಅಯ್ಯ ! ಕಾಮ, ಕ್ರೋಧ, ಲೋಭ, ಮೋಹ, ಮದ, ಮತ್ಸರ,
ಕ್ಷುತ್ತು, ಪಿಪಾಸೆ, ಶೋಕ, ಮೋಹ, ಜನನ ಮರಣಂಗಳ, ಅಡಿಮೆಟ್ಟಿ ನಿಂದು.
ಅಷ್ಟವಿಧಾರ್ಚನೆ – ಷೋಡಶೋಪಚಾರಂಗಳ ಮಾಡಿ ಶಿವನನಂತ ಲೀಲೆಗಳನರ್ಚಿಸಿ
ಫಲ – ಪದ – ಮೋಕ್ಷಂಗಳ ಪಡೆಯಬೇಕೆಂಬ ಬಯಕೆಯನುಳಿದು.
ಅಂತರಂಗದ ಜ್ಞಾನ, ಬಹಿರಂಗದ ಸತ್ಕ್ರಿಯಾಚಾರಂಗಳಲ್ಲಿ
ದೃಢ ಚಿತ್ತದಿಂದ ನಿಂದು, ಹಿಂದೆ ಹೇಳಿದ
ಸದ್ಭಕ್ತ – ಮಹೇಶ್ವರ – ಪ್ರಸಾದಿ – ಪ್ರಾಣಲಿಂಗಿ – ಶರಣಸ್ಥಲಂಗಳನೊಳಗು
ಮಾಡಿಕೊಂಡು,
ಪರಾತ್ಪರ ನಿತ್ಯತೃಪ್ತಾನಂದ ಮೂರ್ತಿಯಾಗಿ.
ಝುಗಝುಗಿಸುವ ನಿಜೈಕ್ಯನಂತರಂಗದಲ್ಲಿ ಚಿದ್ರೂಪಲೀಲೆಯಿಂ
ಸಾಕಾರ – ನಿರಾಕಾರ; ಸಕಲ – ನಿಃಕಲತತ್ತ್ವಂಗಳನೊಳಕೊಂಡು,
ಹದಿಮೂರು ಸ್ಥಲಂಗಳ ಗರ್ಭೀಕರಿಸಿಕೊಂಡು,
ಎಂಟುನೂರ ಆರುವತ್ತನಾಲ್ಕು ಮಂತ್ರಮಾಲಿಕೆಗಳ ಪಿಡಿದುಕೊಂಡು,
ಇಪ್ಪತ್ತುನಾಲ್ಕು ಸಕೀಲಗರ್ಭದಿಂ
ಜ್ಯೋತಿ ಜ್ಯೋತಿ ಕೂಡಿ ಭಿನ್ನ ದೋರದ ಹಾಂಗೆ ಏಕಸ್ವರೂಪಿನಿಂದ
ವೇದಸ್ವರೂಪ ಮಹಾಲಿಂಗವಾಗಿ ನೆಲಸಿರ್ಪುದು ನೋಡ !
ನಿರವಯಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೮೭॥

೭೮೧

ಅಯ್ಯ ! ಕಾರ್ಯನಲ್ಲ ಕಾರಣನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಭೇದಕನಲ್ಲ ಸಾಧಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಪಾತಕನಲ್ಲ ಸೂತಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ದ್ವೈತನಲ್ಲ ಅದ್ವೈತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಕಾಟಕನಲ್ಲ ಕೀಟಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಎನ್ನವನಲ್ಲ ನಿನ್ನವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಸಂಕಲ್ಪನಲ್ಲ ವಿಕಲ್ಪನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಒಮ್ಮೆ ಆಚಾರದವನಲ್ಲ ಒಮ್ಮೆ ಅನಾಚಾರದವನಲ್ಲ ನೋಡ !
ನಿರವಯಶೂನ್ಯಲಿಂಗಮೂರ್ತಿ.
ಕುಂಟಣಿಯಲ್ಲ ನೆಂಟಣಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ದುಶ್ಶೀಲನಲ್ಲ ದುರ್ಮಾರ್ಗಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.

ಜಾತಿಯುವನಲ್ಲ ಅಜಾತಿಯುವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಇಂದು ಉಭಯವಳಿದು ಬೆಳಗುವ ಸಂಗನಬಸವಣ್ಣನ
ಉನ್ಮನಾಗ್ರದಲಿ ಹೊಳೆವಾತ ತಾನೆ ನೋಡ ! ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೮೭॥

೮೮

ಅಯ್ಯ, ಕ್ರಿಯಾಚಾರದಲ್ಲಿ ಮೋಹವುಳ್ಳಾತನ ಸದ್ಗುರುವೆಂಬೆ ನೋಡ.
ಜ್ಞಾನಾಚಾರದಲ್ಲಿ ನೈಷ್ಠೆಯುಳ್ಳಾತನ ಸಚ್ಚಿದಾನಂದಲಿಂಗವೆಂಬೆ ನೋಡ.
ಭಾವಾಚಾರದಲ್ಲಿ ಪ್ರೇಮವುಳ್ಳಾತನ ಪರಾತ್ಪರಜಂಗಮವೆಂಬೆ ನೋಡ.
ಈ ತ್ರಿವಿಧಾಚಾರದಲ್ಲಿ ಕಾಂಕ್ಷೆಯುಳ್ಳಾತನ ನಿಜಶರಣನೆಂಬೆ ನೋಡ.
ಇಂತು ಆಚಾರಸನ್ಮಾರ್ಗ ಗುರುಲಿಂಗಜಂಗಮಶರಣರೆ
ಗುಹೇಶ್ವರಲಿಂಗಕ್ಕೆ ಮೋಕ್ಷಮಂದಿರವೆಂಬೆ ನೋಡಾ, ಚೆನ್ನಬಸವಣ್ಣಾ. ॥೮೮॥

೮೯

ಅಯ್ಯ ! ಗಮನಿಯಲ್ಲ ನಿರ್ಗಮನಿಯಲ್ಲ ನೋಡ !
ನಿರವಯ ಶೂನ್ಯಲಿಂಗಮೂರ್ತಿ
ಸುಚಿಂತನಲ್ಲ, ದುಶ್ಚಿಂತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಕುಟಿಲನಲ್ಲ ಕುಹಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಬೂಟಕನಲ್ಲ ಚಾಟಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ದಿಟದವನಲ್ಲ ಸಟೆಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸಂಚಲನಲ್ಲ ವಂಚಲನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಪ್ರಪಂಚನಲ್ಲ ಪ್ರಮಾಣನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಗಣಿತನಲ್ಲ ಅಗಣಿತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಖಂಡಿತನಲ್ಲ ಅಖಂಡಿತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಚರಿತನಲ್ಲ ಅಚರಿತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಭರಿತನಲ್ಲ ಸುರಿತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಚಾಡಿಯಲ್ಲ ಚಿತಾಲನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಗಾರುಡನಲ್ಲ (ಗಾಡಿಗನಲ್ಲ?) ಕುರೂಪನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಮರುಳನಲ್ಲ ದುರುಳನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಆಶಕನಲ್ಲ ಪಾಶಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಇಂತು ಉಭಯವಳಿದುಳಿದು ಸಂಗನ ಬಸವಣ್ಣನ
ಅರುವಿನ ಮಧ್ಯದಲಿ ಬೆಳಗುವ ಜ್ಯೋತಿ ತಾನೆ ನೋಡ ! ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೮೯॥

೭೮೪

ಅಯ್ಯ ! ಜ್ಞಾನೇಂದ್ರಿಯ, ಕರ್ಮೇಂದ್ರಿಯ, ವಿಷಯಂಗಳು,
ಕರಣ ಮುಂತಾದವರ ಆಶಾಪಾಶಂಗಳನುಳಿದು
ನುಡಿಯಂತೆ ನಡೆ, ನಡೆಯಂತೆ ನುಡಿ – ದೃಢಚಿತ್ತದಿಂದ ಘಟ್ಟಿಗೊಂಡು,
ಹಿಂದೆ ಹೇಳಿದ ಸದ್ಭಕ್ತ – ಮಹೇಶ್ವರ – ಪ್ರಸಾದಿ – ಪ್ರಾಣಲಿಂಗಿ
ಸ್ಥಲಂಗಳ ನೊಳಗುಮಾಡಿಕೊಂಡು,
ಪರಮಪರಿಣಾಮಿ ಅಚಲಾನಂದಮೂರ್ತಿಯಾಗಿ,
ಝಗಝಗಿಸಿ ನೆಲಸಿರ್ಪ ಶಿವಶರಣನಂತರಂಗದಲ್ಲಿ,
ಚಿನ್ಮಯಪರನಾದ ಸ್ವಯಂಭು ಲೀಲೆಯಿಂ,
ಮಿಶ್ರಾಮಿಶ್ರಂಗಳೊಡನೆ ಕೂಡಿದ, ಸಕಲ ತತ್ವಂಗಳನೊಳಕೊಂಡು,
ಹದಿಮೂರುಸ್ಥಲಂಗಳ ಗರ್ಭೀಕರಿಸಿಕೊಂಡು,
ಆರುಸಾವಿರದ ಒಂಬೈನೂರ ಹನ್ನೆರಡು ಮಂತ್ರ ಮಾಲೆಗಳ ಪಿಡಿದುಕೊಂಡು,
ಇಪ್ಪತ್ತುನಾಲ್ಕು ಸಕೀಲಗರ್ಭದಿಂ
ಕ್ಷೀರಕ್ಷೀರ ಬೆರದು ಭಿನ್ನದೋರದ ಹಾಂಗೆ, ಏಕರೂಪಿನಿಂದೆ
ಈಳನಸ್ವರೂಪ ಪ್ರಸಾದಲಿಂಗಮೂರ್ತಿಯಾಗಿ [ನೆಲಸಿರ್ಪುದು] ನೋಡ !
ನಿರವಯಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೯೦॥

೭೮೫

ಅಯ್ಯ ತತ್ವ ವಿತತ್ವಗಳಿಲ್ಲದಂದು, ಪ್ರಕೃತಿ ಪುರುಷರಿಲ್ಲದಂದು,
ಜೀವ – ಪರಮರೆಂಬ ಭಾವ ತಲೆದೋರದಂದು, ಏನೂ ಏನೂ ಇಲ್ಲದಂದು
ಬಯಲು ಬಲಿದು ಒಂದು ಬಿಂದುವಾಯಿತ್ತು ನೋಡಾ.
ಆ ಬಿಂದು ಅಕ್ಷರತ್ರಯದ ಗದ್ದುಗೆಯಲ್ಲಿ ಕುಳ್ಳಿರಲು
ಓಂಕಾರ ಉತ್ಪತ್ತಿಯಾಯಿತ್ತು.
ಆ [ಓಂಕಾರದ] ನಾದದಲ್ಲಿ ಮೂರ್ತಿಗೊಂಡನೊಬ್ಬ ಶರಣ.
ಆ ಶರಣನಿಂದಾಯಿತ್ತು ಪ್ರಕೃತಿ. ಆ ಪ್ರಕೃತಿಯಿಂದಾಯಿತ್ತು ಲೋಕ.
ಈ ಲೋಕ ಲೌಕಿಕವನತಿಗಳೆದು ನಿಜದಲ್ಲಿ ನಿವಾಸಿಯಾಗಿಪ್ಪ,
ಗುಹೇಶ್ವರನ ಶರಣ ಚೆನ್ನಬಸವಣ್ಣನ ಘನವನು
ಬಸವಣ್ಣನ ಕೃಪೆಯಿಂದಲರಿದು ನಮೋ ನಮೋ ಎನುತಿರ್ದೆನು. ॥೯೧॥

೭೮೬

ಅಯ್ಯ ತನುತ್ರಯಂಗಳು. ಜೀವತ್ರಯಂಗಳು.
ಆತ್ಮತ್ರಯಂಗಳು. ಅವಸ್ಥಾತ್ರಯಂಗಳು. ಗುಣತ್ರಯಂಗಳು.

ಮನತ್ರಯಂಗಳು, ತಾಪತ್ರಯಂಗಳು, ಕಾಲತ್ರಯಂಗಳು,
ಕರ್ಮತ್ರಯಂಗಳು, ಭಾವತ್ರಯಂಗಳು, ಮಲತ್ರಯಂಗಳು,
ಕರಣತ್ರಯಂಗಳು ಮೊದಲಾದ ಪ್ರವೃತ್ತಿಮಾರ್ಗವನುಳಿದು,
ಹಿಂದೆ ಹೇಳಿದ ಸದ್ಭಕ್ತ – ಮಹೇಶ್ವರಸ್ಥಲದಲ್ಲಿ ನಿಂದು –
ಅಷ್ಟಾವಧಾನ ಅವಿರಳಾನಂದಮೂರ್ತಿಯಾಗಿ ಪ್ರಕಾಶಿಸುವ
ನಿಜಪ್ರಸಾದಿಯಂತರಂಗದಲ್ಲಿ ಚಿತ್ಘನ ಸ್ವರೂಪವಲೀಲೆಯಿಂ
ಅಂತರಂಗದಲ್ಲಿ ಅಂಗತತ್ವ, ಲಿಂಗತತ್ವ, ಶಿವತತ್ವ, ಪರತತ್ವ ಮೊದಲಾದ
ಸಮಸ್ತ ತತ್ವಂಗಳನೊಳಕೊಂಡು,
ಹದಿನಾರು ಸ್ಥಲಂಗಳ ಗರ್ಭೀಕರಿಸಿಕೊಂಡು,
ನಾಲ್ಕು ಸಾವಿರದ ಮುನ್ನೂರಿಪ್ಪತ್ತು ಮಂತ್ರಮಾಲಿಕೆಗಳ ಪಿಡಿದುಕೊಂಡು
ಇಪ್ಪತ್ತುನಾಲ್ಕು ಸಕೀಲಗರ್ಭದಿಂ ಪಾದೋದಕ ಪ್ರಸಾದವ ಕೊಂಡ
ಅಂಗ – ಮನ – ಪ್ರಾಣ – ಭಾವ – ಇಂದ್ರಿಯಂಗಳೆಲ್ಲ
ಪಾದೋದಕ ಪ್ರಸಾದಮಯವೆಂಬ ಹರಗುರುವಾಕ್ಯದಿಂ
ಚಿನ್ನಬಣ್ಣ ಪ್ರಕಾಶದ ಹಾಂಗೆ ಭಿನ್ನ ಭಾವವಿಲ್ಲದೆ ಏಕರೂಪಿನಿಂದ
ನಿರೀಕ್ಷಣಾಮೂರ್ತಿ ಶಿವಲಿಂಗವಾಗಿ ನೆಲಸಿರ್ಪುದು ನೋಡ !
ನಿರವಯಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೬೨॥

೭೮೭

ಅಯ್ಯ, ತನುವಿನಾಸೆಯನಳಿದಾತನ ಸತ್ತುಚಿತ್ತಾನಂದನ ಗುರುವೆಂಬೆ.
ಮನದ ಕಾಂಕ್ಷೆಯನಳಿದಾತನ ಸರ್ವಾಚಾರನ ಲಿಂಗವೆಂಬೆ ನೋಡಾ.
ಭಾವದ ಭ್ರಮೆಯ ನಳಿದಾತನ ಷಟ್‌ಸ್ಥಲಜಂಗಮವೆಂಬೆ ನೋಡಾ.
ಪ್ರಾಣನ ಪ್ರಪಂಚನಳಿದಾತನ
ನಿರಾತಂಕನಿರಾಲಂಬ ನಿಷ್ಕಳಂಕನಿಜಶರಣನೆಂಬೆ ನೋಡಾ.
ಈ ಚತುರ್ವಿಧ ಪಾಶವ ಗೆದ್ದಾತನ ಗುಹೇಶ್ವರಲಿಂಗವೆಂಬೆ ನೋಡಾ
ಚೆನ್ನಬಸವಣ್ಣಾ. ॥೬೩॥

೭೮೮

ಅಯ್ಯ ! ದರಿದ್ರನಲ್ಲ ಧನಿಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಕುಚಿತ್ತದವನಲ್ಲ ಸುಚಿತ್ತದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಕುಬುದ್ಧಿಯವನಲ್ಲ ಸುಬುದ್ಧಿಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಅಹಂಕಾರಿಯಲ್ಲ ನಿರಹಂಕಾರಿಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಕುಮನದವನಲ್ಲ ಸುಮನದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ

ಅಜ್ಞಾನದವನಲ್ಲ ಸುಜ್ಞಾನದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ದುರ್ಭಾವದವನಲ್ಲ ಸದ್ಭಾವದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸಕಲನಲ್ಲ ನಿಃಕಲನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಅರ್ಪಿತನಲ್ಲ ಅನರ್ಪಿತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಆಹ್ವಾನನಲ್ಲ ವಿಸರ್ಜನನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಇಂತು ಉಭಯವಳಿದು ಬೆಳಗುವ ಸಂಗನಬಸವಣ್ಣನ
ಕರನಯನದಲ್ಲಿ ಝಗಝಗಿಸುವ ಗುಹೇಶ್ವರಲಿಂಗವು ತಾನೆ ನೋಡ !
ಚೆನ್ನಬಸವಣ್ಣ. ||೯೪||

೭೯

ಅಯ್ಯ ! ದೀಕ್ಷಾಗುರು, ಶಿಕ್ಷಾಗುರು, ಜ್ಞಾನಗುರುಗಳೆಂಬ ತ್ರಿವಿಧ ಗುರುಗಳು:
ಕ್ರಿಯಾಲಿಂಗ, ಜ್ಞಾನಲಿಂಗ, ಭಾವಲಿಂಗವೆಂಬ ತ್ರಿವಿಧ ಲಿಂಗಗಳು:
ಸ್ವಯ, ಚರ, ಪರವೆಂಬ ತ್ರಿವಿಧ ಜಂಗಮವು–
ಈ ಒಂಬತ್ತು ಆಚಾರಲಿಂಗದಲ್ಲಿ ಸಂಬಂಧವು.
ಕ್ರಿಯಾಗಮ, ಭಾವಾಗಮ, ಜ್ಞಾನಾಗಮವೆಂಬ ತ್ರಿವಿಧ ಲಿಂಗಗಳು,
ಸಕಾಯ, ಅಕಾಯ, ಪರಕಾಯವೆಂಬ ತ್ರಿವಿಧ ಗುರುಗಳು:
ಧರ್ಮಾಚಾರ, ಭಾವಾಚಾರ, ಜ್ಞಾನಾಚಾರವೆಂಬ ತ್ರಿವಿಧ ಜಂಗಮವು–
ಈ ಒಂಬತ್ತು ಗುರುಲಿಂಗದಲ್ಲಿ ಸಂಬಂಧವು.
ಕಾಯಾನುಗ್ರಹ, ಇಂದ್ರಿಯಾನುಗ್ರಹ, ಪ್ರಾಣಾನುಗ್ರಹವೆಂಬ ತ್ರಿವಿಧ ಗುರುಗಳು
ಕಾಯಾರ್ಪಿತ, ಕರಣಾರ್ಪಿತ, ಭಾವಾರ್ಪಿತವೆಂಬ ತ್ರಿವಿಧ ಲಿಂಗಗಳು:
ಶಿಷ್ಯ, ಶುಶ್ರೂಷ, ಸೇವ್ಯವೆಂಬ ತ್ರಿವಿಧ ಜಂಗಮವು–
ಈ ಒಂಬತ್ತು ಶಿವಲಿಂಗದಲ್ಲಿ ಸಂಬಂಧವು.
ಈ ಮೂರು ಸ್ಥಲವು ಅನಾದಿಭಕ್ತನ ಮಾರ್ಗಕ್ರಿಯಾ ಸ್ವರೂಪು.
ಜೀವಾತ್ಮ, ಅಂತರಾತ್ಮ, ಪರಮಾತ್ಮವೆಂಬ ತ್ರಿವಿಧಲಿಂಗಗಳು:
ನಿರ್ದೇಹಾಗಮ, ನಿರ್ಭಾವಾಗಮ, ನಷ್ಟಾಗಮವೆಂಬ ತ್ರಿವಿಧ ಗುರುಗಳು:
ಆದಿಪ್ರಸಾದಿ, ಅಂತ್ಯಪ್ರಸಾದಿ, ಸೇವ್ಯ ಪ್ರಸಾದಿಯೆಂಬ ತ್ರಿವಿಧ ಜಂಗಮವು–
ಈ ಒಂಬತ್ತು ಜಂಗಮಲಿಂಗದಲ್ಲಿ ಸಂಬಂಧವು–
ದೀಕ್ಷಾಪಾದೋದಕ, ಶಿಕ್ಷಾಪಾದೋದಕ, ಜ್ಞಾನಪಾದೋದಕವೆಂಬ
ತ್ರಿವಿಧ ಲಿಂಗಂಗಳು,
ಕ್ರಿಯಾನಿಷ್ಪ, ಭಾವನಿಷ್ಪ, ಜ್ಞಾನನಿಷ್ಪಯೆಂಬ ತ್ರಿವಿಧ ಗುರುಗಳು:
ಪಿಂಡಾಕಾಶ, ಬಿಂದ್ವಾಕಾಶ, ಮಹದಾಕಾಶವೆಂಬ ತ್ರಿವಿಧ ಜಂಗಮವು–
ಈ ಒಂಬತ್ತು ಪ್ರಸಾದಲಿಂಗದಲ್ಲಿ ಸಂಬಂಧವು.

ಕ್ರಿಯಾಪ್ರಕಾಶ, ಭಾವಪ್ರಕಾಶ, ಜ್ಞಾನಪ್ರಕಾಶವೆಂಬ ತ್ರಿವಿಧ ಲಿಂಗಗಳು
ಕೊಂಡದ್ದು ಪ್ರಸಾದ, ನಿಂದ್ದದ್ದು ಓಗರ,
ಚರಾಚರನಾಸ್ತಿಯೆಂಬ ತ್ರಿವಿಧ ಗುರುಗಳು:
ಬಾಂಢಸ್ಥಲ, ಭಾಜನಸ್ಥಲ, ಅಂಗಲೇಪನಸ್ಥಲವೆಂಬ ತ್ರಿವಿಧ ಜಂಗಮವು–
ಈ ಒಂಬತ್ತು ಮಹಾಲಿಂಗದಲ್ಲಿ ಸಂಬಂಧವು.
ಈ ಮೂರು ಸ್ಥಲವು ಅನಾದಿ ಜಂಗಮದ ಮೀರಿದ ಕ್ರಿಯಾ ಸ್ವರೂಪವು.
ಈ ಉಭಯಂ ಕೂಡಲು ಐವತ್ತುನಾಲ್ಕು ಸ್ಥಲಂಗಳಾದವು. ಮುಂದುಳಿದ
ಮೂರು ಸ್ಥಲಂಗಳಲ್ಲಿ ಭಾವಾಭಾವನಷ್ಟಸ್ಥಲವೆ ಮೂಲ ಗುರುಸ್ವರೂಪವಾಗಿ
ಹದಿನೆಂಟು ಗುರುಸ್ಥಲಂಗಳನೊಳಕೊಂಡು
ಕ್ರಿಯಾಗುರುಲಿಂಗ ಜಂಗಮ ಸ್ವರೂಪವಾದ
ಇಷ್ಟಮಹಾಲಿಂಗದ ಅಧೋಪೀಠಿಕೆಯೆಂಬ ಹಲ್ಲೆಯಲ್ಲಿ
ಸ್ಪರ್ಶನೋದಕ, ಅವಧಾನೋದಕ, ಗುರುಪಾದೋದಕ,
ಅಪ್ಯಾಯನಪ್ರಸಾದ, ಸಮಯಪ್ರಸಾದ, ಗುರುಪ್ರಸಾದ
ಆದಿ ಪ್ರಸಾದ, ನಿಚ್ಚಪ್ರಸಾದವಾಗಿ ತೆರಹಿಲ್ಲದೆ ಒಪ್ಪುತ್ತಿರ್ಪುದು ನೋಡ !
ಜ್ಞಾನಶೂನ್ಯಸ್ಥಲವೆ ಮೂಲ ಜಂಗಮಸ್ವರೂಪವಾಗಿ
ಹದಿನೆಂಟು ಚರಸ್ಥಲಂಗಳನೊಳಕೊಂಡು
ಮಹಾಜ್ಞಾನಗುರುಲಿಂಗಜಂಗಮ ಸ್ವರೂಪವಾದ
ಇಷ್ಟಮಹಾಲಿಂಗದ ಜಲರೇಖೆಯನ್ನುಳ್ಳ ಪಾನಿವಟ್ಟಲಲ್ಲಿ
ಪರಿಣಾಮೋದಕ, ನಿರ್ನಾಮೋದಕ, ಜಂಗಮಪಾದೋದಕ, ನಿತ್ಯೋದಕ,
ಸಮತಾಪ್ರಸಾದ, ಪ್ರಸಾದಿಯ ಪ್ರಸಾದ, ಜಂಗಮ ಪ್ರಸಾದ, ಸದ್ಭಾವ ಪ್ರಸಾದ,
ಜ್ಞಾನಪ್ರಸಾದ, ಸೇವ್ಯ ಪ್ರಸಾದ,
ಅಚ್ಚ ಪ್ರಸಾದವಾಗಿ ತೆರಹಿಲ್ಲದೆ ಒಪ್ಪುತಿರ್ಪುದು ನೋಡ !
ಸ್ವಯ ಪರವರಿಯದ ಸ್ಥಲವೆ ಮೂಲಲಿಂಗಸ್ವರೂಪವಾಗಿ
ಹದಿನೆಂಟು ಲಿಂಗಸ್ಥಲಂಗಳನೊಳಕೊಂಡು
ಜ್ಞಾನಗುರುಲಿಂಗ ಜಂಗಮ ಸ್ವರೂಪವಾದ
ಇಷ್ಟಮಹಾಲಿಂಗದ ಉನ್ನತವಾದ ಗೋಲಕದಲ್ಲಿ
ಅಪ್ಯಾಯನೋದಕ, ಹಸ್ತೋದಕ, ಲಿಂಗಪಾದೋದಕ,
ಪಂಚೇಂದ್ರಿ[ಯ] ವಿರಹಿತಪ್ರಸಾದ,
ಕರಣಚತುಷ್ಟಯವಿರಹಿತ ಪ್ರಸಾದ, ಲಿಂಗಪ್ರಸಾದ
ಅಂತ್ಯಪ್ರಸಾದ ಸಮಯಪ್ರಸಾದವಾಗಿ ತೆರಹಿಲ್ಲದೆ ಒಪ್ಪುತ್ತಿರ್ಪುದು ನೋಡ !
ಇಂತಪ್ಪ ಲಿಂಗಜಂಗಮದ ಪಾದೋದಕ ಪ್ರಸಾದವ ಸ್ವೀಕರಿಸಿದಂಥ

ಜಂಗಮಭಕ್ತರಾದ ಸಹಜಭಕ್ತರೆ ಪ್ರಸಾದಪಾದೋದಕ ಸಂಬಂಧಿಗಳು.
ಇವರು ಸ್ವೀಕರಿಸಿದಂಥ ಪಾದೋದಕವೆ
ನೇತ್ರದಲ್ಲಿ ಕರುಣಜಲ; ವಾಕಿನಲ್ಲಿ ವಿನಯಜಲ; ಅಂತರಂಗದಲ್ಲಿ ಸಮತಾಜಲ –
ಇಂತೀ ತ್ರಿವಿಧೋದಕವೆ ಘಟ್ಟಿಗೊಂಡು ಸಾಕಾರವಾಗಿ,
ತಿಳಿದುಪ್ಪ ಹೆರೆದುಪ್ಪವಾದಂತೆ
ಇಷ್ಟ ಮಹಾಲಿಂಗಕ್ಕೆ ತ್ಯಾಗಾಂಗವಾದ ಶುದ್ಧ ಪ್ರಸಾದವಾಗಿರ್ಪುದಯ್ಯ;
ಪ್ರಾಣಲಿಂಗಕ್ಕೆ ಭೋಗಾಂಗವಾದ ಸಿದ್ಧ ಪ್ರಸಾದವಾಗಿರ್ಪುದಯ್ಯ.
ಭಾವಲಿಂಗಕ್ಕೆ ಯೋಗಾಂಗವಾದ ಪ್ರಸಿದ್ಧ ಪ್ರಸಾದವಾಗಿರ್ಪುದಯ್ಯ.
ಇಂತೀ ತ್ರಿವಿಧಪ್ರಸಾದಪಾದೋದಕವೆ
ಶರಣನ ಶುದ್ಧ ಪ್ರಸಾದವೆ ಜಿಹ್ವೆಯಲ್ಲಿ ಅಚ್ಚಪ್ರಸಾದವಾಗಿರ್ಪುದಯ್ಯ
ಸಿದ್ಧಪ್ರಸಾದವೆ ಪಾದದಲ್ಲಿ ಸಮಯ ಪ್ರಸಾದವಾಗಿರ್ಪುದಯ್ಯ
ಇಂತಪ್ಪ ಶರಣಸ್ವರೂಪವಾದ ಜ್ಞಾನಲಿಂಗಜಂಗಮದ
ತೀರ್ಥಪ್ರಸಾದ ಸ್ವರೂಪವನ್ನು ಅರಿಯದೆ,
ಕ್ರಿಯಾ 'ಜಂಗಮಲಿಂಗ'ದ ತೀರ್ಥಪ್ರಸಾದವನ್ನು ತೆಗೆದುಕೊಳ್ಳಬಹುದು.
ಜ್ಞಾನಲಿಂಗಜಂಗಮ ತೀರ್ಥಪ್ರಸಾದವನ್ನು ತೆಗೆದುಕೊಳ್ಳಲಾಗದು ಎಂಬ
ಅಜ್ಞಾನಿಗಳ ಎನಗೆ ತೋರದಿರ ! ಗುಹೇಶ್ವರ ! ||೯೫||

೭೯೦

ಅಯ್ಯ ! ಧರ್ಮಿಯಲ್ಲ ಕರ್ಮಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಕಾಮಿಯಲ್ಲ ನಿಃಕಾಮಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಕ್ರೋಧಿಯಲ್ಲ ನಿಃಕ್ರೋಧಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಲೋಭಿಯಲ್ಲ ನಿರ್ಲೋಭಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಮೋಹಿಯಲ್ಲ ನಿರ್ಮೋಹಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಮದದವನಲ್ಲ ನಿರ್ಮದದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಮತ್ಸರದವನಲ್ಲ ನಿರ್ಮತ್ಸರದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಆದೀತೆನ್ನ ಆಗದೆನ್ನ ನೋಡ ! ನಿರವಯಶೂನ್ಯಲಿಂಗಮೂರ್ತಿ
ರೋಗವೆನ್ನ ನಿರೋಗವೆನ್ನ ನೋಡ ! ನಿರವಯಶೂನ್ಯಲಿಂಗಮೂರ್ತಿ
ಬೇಕೆನ್ನ ಬೇಡವೆನ್ನ ನೋಡ ! ನಿರವಯಶೂನ್ಯಲಿಂಗಮೂರ್ತಿ
ಇಂತು ಉಭಯವಳಿದ ರಾಜಾಧಿರಾಜ ಸಂಗನಬಸವಣ್ಣನ
ಸರ್ವಾಂಗದಿ ಬೆಳಗುವ ಪರಂಜ್ಯೋತಿ ಗುಹೇಶ್ವರಲಿಂಗವು ತಾನೆ ನೋಡ !
ಚೆನ್ನಬಸವಣ್ಣ. ||೯೬||

೭೯೧

ಅಯ್ಯ ! ನವರತ್ನ ಪ್ರಕಾಶಕ್ಕೆ ಸಮಾನವಾದ ಶಿಲಾರೂಪ
ಪಾಷಾಣಂಗಳ ಮಧ್ಯದಲ್ಲಿ ಕ್ರಿಯಾಗ್ನಿ ಇರ್ದು ದಹನಕೃತ್ಯಂಗಳಿಗೆ ಒಳಗಾಗದಿರ್ಪಂತೆ;
ಕುಂತಣದೇಶ ಮೊದಲಾದ ಸಮಸ್ತ ದೇಶಂಗಳಲ್ಲಿ ಸೂರ್ಯನ ಪ್ರಕಾಶ ಮರೀಚಿಕಾಜಲ:
ಅಶ್ವ – ಗಜ – ಎರಳೆಗಳೋಪಾದಿಯಲ್ಲಿ
ಕಣ್ಣಿಗೆ ಕಾಣಿಸಿ ಕೈವಶವಾಗದಂತೆ:
ಒಬ್ಬಾನೊಬ್ಬ ಚಿತ್ರಕನ ಮನದ ಮಧ್ಯದಲ್ಲಿ
ಅನಂತ ಚಿತ್ರವಿಚಿತ್ರ ಪ್ರಕಾಶಂಗಳಡಗಿರ್ಪಂತೆ;
ಕಂಠ, ಲೆಕ್ಕಣಿಕೆ, ಬಳಹಂಗಳ ಮೊನೆಯಲ್ಲಿ ಸಮಸ್ತ ವರ್ಣಂಗಳಡಗಿರ್ಪಂತೆ;
ಕನ್ನಡಿಯೊಳಗೆ ಅನಂತ ಬಿಂಬಂಗಳಡಗಿರ್ಪಂತೆ;
ಪಟ್ಟೆ ಪಟ್ಟಾವಳಿಗಳು ಮೊದಲಾದ ಸಮಸ್ತವಸನಂಗಳ ಮಧ್ಯದಲ್ಲಿ
ಸಮಸ್ತ ಬಣ್ಣಂಗಳಡಗಿರ್ಪಂತೆ;
ಮೂಕನಂತರಂಗದಲ್ಲಿ ನಾಮ – ರೂಪ – ಕ್ರಿಯೆಗಳಡಗಿರ್ಪಂತೆ;
ಕವಿತ್ವವುಳ್ಳ ಶಾಸ್ತ್ರಜ್ಞನಂತರಂಗದಲ್ಲಿ
ಅರ್ಥ – ಅನ್ವಯ – ಆಕಾಂಕ್ಷೆಗಳಡಗಿರ್ಪಂತೆ;
ಸಚ್ಚಿದಾನಂದ ಸ್ವರೂಪ ಸದ್ಭಕ್ತ ಶಿವಶರಣಗಣಂಗಳಲ್ಲಿ ಗೋಪ್ಯವಾಗಿರ್ದು
ಹಠಯೋಗಿ ಮೊದಲಾದ ಭಿನ್ನಕರ್ಮಕಾಂಡಿಗಳಿಗೆ ಅಗೋಚರವಾಗಿರ್ಪುದು ನೋಡ !
ನಿರವಯಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೯೭॥

೭೯೨

ಅಯ್ಯ ! ನಾಟಕನಲ್ಲ ಬೂಟಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಶೀಲಿಗನಲ್ಲ ಕಪಟನಾಟಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ರುಂಡಮಾಲಿಗನಲ್ಲ ಗುಂಡುಗಾಸಿಗನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಪುಲಿಚರ್ಮನಲ್ಲ ಗಜಚರ್ಮನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ದಕ್ಷಾಧ್ವರಸಂಹರನಲ್ಲ ತ್ರಿಪುರಾರಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ನಂದಿವಾಹನನಲ್ಲ ಭೃಂಗಿಸ್ತುತನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಸರ್ಪಧರನಲ್ಲ ಚಂದ್ರಶೇಖರನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಗಂಗಾಧರನಲ್ಲ ಗೌರಿಪ್ರಿಯನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಗಿರಿಜಾವಲ್ಲಭನಲ್ಲ ಪಾರ್ವತಿಪ್ರಿಯನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಯೋಗಿಯಲ್ಲ ಜೋಗಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಶ್ರವಣನಲ್ಲ ಸನ್ಯಾಸಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.

ಕಾಳಾಮುಖಿಯಲ್ಲ ಪಾಶುಪತಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಇಂತು ಉಭಯವಳಿದ ಸಂಗನಬಸವಣ್ಣನ
ಸರ್ವಾಂಗದಿ ಬೆಳಗುವ ಮಹಾಜ್ಯೋತಿ ತಾನೆ ನೋಡ ! ಗುಹೇಶ್ವರಲಿಂಗವು
ಚೆನ್ನಬಸವಣ್ಣ. ||೯೦||

೭೯೩

ಅಯ್ಯ ! ನಿಜವಸ್ತು ನೆಲೆಸಿರ್ಪ ನೇತ್ರವೇ
ಗುಹ್ಯಕ್ಕೆ ಗುಹ್ಯ, ಗೋಪ್ಯಕ್ಕೆ ಗೋಪ್ಯ
ರಹಸ್ಯಕ್ಕೆ ರಹಸ್ಯ, ಕೂಟಕ್ಕೆ ಕೂಟ
ನೋಟಕ್ಕೆ ನೋಟ, ಬೇಟಕ್ಕೆ ಬೇಟ.
ಅದೆಂತೆಂದಡೆ:
ಲಿಂಗಸ್ಯ ಸಾಯಕಂ ನೇತ್ರಂ ।
ಚುಕ್ಷುರ್ಲಿಂಗಸ್ಯ ಚಕ್ಷುಸಃ ॥
ಇಂತೆಂದುದಾಗಿ,
ಗುರುಕಟಾಕ್ಷೆಯಿಂದ ಇಷ್ಟ–ಪ್ರಾಣ–ಭಾವಲಿಂಗ ಸಂಬಂಧವಾದ
ಮಹಾಘನ ಚಕ್ಷುವೆ ಗುಹೇಶ್ವರಲಿಂಗಕ್ಕೆ ಮಹಾಪ್ರಸಾದ ನೋಡಾ
ಸಿದ್ಧರಾಮಯ್ಯಾ. ||೯೧||

೭೯೪

ಅಯ್ಯ ! ನಿರವಯಶೂನ್ಯಮೂರ್ತಿ ಗುಹೇಶ್ವರಲಿಂಗಕ್ಕೆ
ಎನ್ನ ಅಷ್ಟತನುವೆ ಅಷ್ಟ ವಿಧಾರ್ಚನೆಯಾಗಿ,
ಎನ್ನ ಅಷ್ಟಾತ್ಮ-ಅಷ್ಟಕರಣಂಗಳೆ ಷೋಡಶೋಪಚಾರವಾಗಿ,
ಶರಣಸತಿ-ಲಿಂಗಪತಿಯೆಂಬ ಉಭಯ ಭೇದವಳಿದು ಏಕವಾಗಿ
ಎಲೆಗಳೆದ ವೃಕ್ಷದಂತೆ ಉಲುಹಡಗಿರ್ದೆನಯ್ಯ.
ತೆರೆಯಳಿದ ಅಂಬುಧಿಯಂತೆ ಪರಮ ಚಿದ್ಘನಗುರು ಶಿವಸಾಗರದೊಳಗೆ ಮುಳುಗಿ
ಪರಮ ಚಿದ್ಗಂಭೀರನಾಗಿರ್ದೆನಯ್ಯ
ಘಟವನಳಿದ ಅವಕಾಶದಂತೆ
ಬಚ್ಚಬರಿಯ ಬಯಲಾಗಿ ನಿಶ್ಚಲನಾಗಿರ್ದೆನಯ್ಯಾ
ಪಟವನಳಿದ ಚಿತ್ರದಂತೆ ನಿರ್ಮಲ ನಿರಾವರಣನಾಗಿ
ಶುದ್ಧ ಅಮಲಬ್ರಹ್ಮವಾಗಿ ಪ್ರತಿಯಿಲ್ಲದ ಅಪ್ರತಿಮ
ಅನುಮಿಷ ಅನುಪಮ ಅಪ್ರಮಾಣ ಅನಾಮಯ ಅಗಣಿತ ಅಚಲಾನಂದ
ನಿತ್ಯ ನಿಃಕಳಂಕ ನಿರ್ಮಾಯ ನಿರಾಲಂಬ ನಿರ್ಗುಣ ನಿತ್ಯಮುಕ್ತ

ನಿತ್ಯತೃಪ್ತ ನಿಶ್ಚಿಂತ ನಿಃಕಾಮ್ಯ ನಿಜಷಡ್ಗುಣೈಶ್ವರ್ಯ
ಮದ್ಗುರು ಸಂಗನಬಸವಣ್ಣನ ಚಿದ್ಬೆಳಗಿನ ಬಯಲೊಳಗೆ
ಬಯಲಪ್ಪುದು ತಪ್ಪದು ! ನಿಮ್ಮ ಕೃಪೆಯಿಂದ ! ನೋಡ !
ಚೆನ್ನಬಸವಣ್ಣ. ||೧೦೦||

೭೯೫

ಅಯ್ಯ ! ನಿರವಯಶೂನ್ಯಲಿಂಗದೇಹಿ ನಿಜಕರುಣಪ್ರಸಾದಾತ್ಮನು
ಆ ನಿರವಯ ಶೂನ್ಯಲಿಂಗದಾಚಾರದಲ್ಲಿಯೆ ನಡೆವನಯ್ಯ !
ಲೋಕವರ್ತಕ ಲೋಕಚಾತುರ್ಯಕ್ಕೆ, ಲೋಕವ್ಯವಹರಣೆಯನನುಕರಿಸಿ ನಡೆವನಲ್ಲ !
ನಿಜಶಿವಜ್ಞಾನ–ನಿಜಶಿವಕ್ರಿಯಾಪ್ರಕಾಶವ ಸಂಬಂಧಿಸಿಕೊಂಡು
ಸರ್ವಾಂಗವು ನಿರವಯಶೂನ್ಯಲಿಂಗರೂಪವಾಗಿ
ಲಿಂಗಕ್ಕೆ ಲಿಂಗವೆ ಭಾಜನ ಪದಾರ್ಥ-ಪ್ರಸಾದ–ಪರಿಣಾಮವಾಗಿರಬಲ್ಲಡೆ
ಅದು ಲಿಂಗೈಕ್ಯ ನೋಡ !
ನೆಲನಿಲ್ಲದ ನಿರ್ಮಲ ಚಿದ್ಭೂಮಿಯಲ್ಲಿ
ಸ್ವಯಜ್ಞಾನಶಿಶು ಉದಯವಾಯಿತ್ತು ನೋಡ ! ಆ ಸ್ವಯಜ್ಞಾನ ಶಿಶು
ಊರ್ಧ್ವಲೋಕಕ್ಕೆ ಹೋಗಿ ವ್ಯೋಮಾಮೃತಪ್ರಸಾದವನುಂಡು
ನಾಮರೂಪು–ಕ್ರಿಯೆಗಳನಳಿದು, ನಿರವಯಶೂನ್ಯಲೀಲೆಯ ಧರಿಸಿ
ಸೋಮನಾಳದಲ್ಲಿ ಶುಭ್ರ ಕಳೆ; ಪಿಂಗಳನಾಳದಲ್ಲಿ ಸುವರ್ಣಕಳೆ;
ಸುಷುಮ್ನನಾಳದಲ್ಲಿ ಸುಜ್ಞಾನಜ್ಯೋತಿಪ್ರಕಾಶದಂತೆ
ಏಳುನೂರ ಎಪ್ಪತ್ತುನಾಳದಲ್ಲಿ ಹೊಳೆವುತ್ತಿರ್ಪ
ಪರಮಗುರು ಸಂಗನಬಸವಣ್ಣನ ಬೆಳಗಿನ ನಿಜಪ್ರಸಾದದೊಳಗೆ
ಗುಹೇಶ್ವರ ಪ್ರಭುವೆಂಬ ರೂಪತಾಳಿ, ಪಕ್ವವಾದ ಮೇಲೆ
ಮತ್ತಲ್ಲಿಯೆ ನಿರವಯಶೂನ್ಯವಪ್ಪುದು ತಪ್ಪದು ನೋಡ !
ಚೆನ್ನಬಸವಣ್ಣ. ||೧೦೧||

೭೯೬

ಅಯ್ಯ ! ನಿರವಯಶೂನ್ಯಲಿಂಗಮೂರ್ತಿಯ ನಿಲುಕಡೆ ಎಂತೆಂದಡೆ,–
ಸಾಕಾರನಲ್ಲ ನಿರಾಕಾರನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಆದಿಯಲ್ಲ ಅನಾದಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಇಹದವನಲ್ಲ ಪರದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಸುಖದವನಲ್ಲ ದುಃಖದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಪುಣ್ಯದವನಲ್ಲ ಪಾಪದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.

ಕರ್ತೃವಲ್ಲ ಭೃತ್ಯನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಕಾರಣನಲ್ಲ ಕಾರ್ಯನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಧರ್ಮಿಯಲ್ಲ ಕರ್ಮಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಪೂಜ್ಯನಲ್ಲ ಪೂಜಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ.
ಇಂತು ಉಭಯವಳಿದು ಬೆಳಗುವ ಸಂಗನಬಸವಣ್ಣನ
ಹೃತ್ಕಮಲಮಧ್ಯದಲ್ಲಿ ನೆಲಸಿರ್ಪುದು ನೋಡ ! ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೧೦೨॥

೭೯೭

ಅಯ್ಯ ! ನಿರಾಳ ನಿಃಶೂನ್ಯ ಪರಮ ಭಕ್ತ–ಜಂಗಮ ತಾನಾಗಲರಿಯದೆ
ಬರಿದೆ ಅಹಂಕರಿಸಿ ಮುಂದುಗೊಂಡು ಮೂರು ಮಲಗಳ ಸ್ವೀಕರಿಸಿ,
ನಾವೆ ಭಕ್ತ–ಜಂಗಮವೆಂದು ನುಡಿವ ಕರ್ಮಕಾಂಡಿಗಳು
ಕಾಶಿ, ಕೇತಾರ, ಶ್ರೀಶೈಲ, ಗಯಾ, ಪ್ರಯಾಗ, ಶಿವಗಂಗೆ, ಕಂಚಿ,
ಕಾಳಹಸ್ತಿ, ಪಂಪಾಕ್ಷೇತ್ರ,
ವೀರಣ್ಣ, ಬಸವಣ್ಣ, ಕಲ್ಲಣ್ಣ, ಮಲ್ಲಣ್ಣ,
ಕಂಥೆ, ಕಮಂಡಲ, ಗದ್ದಿಗೆ, ಪಾವುಗೆ, ಭಸ್ಮ, ಘಂಟಿಕೆ, ಪುರಾಣ, ದಂಡಾಗ್ರ,
ಗಿಳಿಲು, ಶಂಖು,
ತಿಥಿ, ವಾರ, ನಕ್ಷತ್ರ, ಹುಣ್ಣಿವೆ, ಅಮಾವಾಸ್ಯೆ, ಸೂರ್ಯ, ಚಂದ್ರಾಗ್ನಿ, ದೀಪಾರತಿ
ಗಂಗೆ, ಗೌರಿ, ವಿಘ್ನೇಶ್ವರ ಮೊದಲಾದವು ಇವು ದೈವಂಗಳೆಂದು
ಕಲ್ಲು, ಮಣ್ಣು, ಮರದಿಂದ ರಚಿಸಿ, ಸಂದಿ-ಗೊಂದಿ–ಮಾಡು-
ಜಗುಲಿಯ ಮಾಡಿಟ್ಟು,
ಅದರ ತೊಳೆದ ನೀರು, ಎಂಜಲವ ತಿಂಬವರ ದೇವ–ಭಕ್ತರೆನಬಹುದೆ ?
ಇಂತಪ್ಪ ಅನಾಚಾರಿ ಶ್ವಪಚರ, ಭಕ್ತ–ಜಂಗಮ–ದೇವರೆಂದು ಪೂಜಿಸಲಾಗದು.
ನಿರಾಭಾರಿ ವೀರಶೈವಾಚಾರ ಕ್ರಿಯಾಜ್ಞಾನ ವೈರಾಗ್ಯ ಸದ್ಭಕ್ತಿಯುಳ್ಳ
ಸದ್ಭಕ್ತ ಶಿವಶರಣನ ಪೂಜಿಸಿ ಪಾದೋದಕ–ಪ್ರಸಾದವ ಕೊಂಡಡೆ
ಭವಪಾಶಕರ್ಮಂಗಳು ಮಾಣ್ಬವು ಕಾಣಾ ಗುಹೇಶ್ವರಲಿಂಗದಲ್ಲಿ
ಚೆನ್ನಬಸವಣ್ಣ. ॥೧೦೩॥

೭೯೮

ಅಯ್ಯ ! ನೀಲಮಣಿ ಮಧ್ಯಸ್ಥಾನದಲ್ಲಿ,
ಕಾರ ಮೇಘದೊಳಗಿನ ಮಿಂಚಿನ ಪ್ರಕಾಶವಾಗಿ

ಚಿದಾಕಾಶಸ್ವರೂಪದಿಂದ ಪೀತವರ್ಣ ಮೊದಲಾಗಿ ಅನಂತ ವರ್ಣಸ್ವರೂಪವಾಗಿ
ಅತ್ಯಂತವಾದ ಅಣುರೂಪವಾಗಿ
ಬದನೆಯ ಮುಳ್ಳಿನ ಹಾಗೆ
ಅನಂತ ಪ್ರಕಾರದಿಂದ ಕಾಣಲ್ಪಡುವುದು ನಿಜಶಿವಯೋಗಿಗೆ,
ಲಿಂಗಧ್ಯಾನಿಗಳಿಗೆ ಅನಾದಿಮೂಲ ಪ್ರಣಮಸ್ವರೂಪದಿಂದ
ಮುಖಕಮಲದ ಮೇಲೆ ಕಾಣಲ್ಪಡುವುದು ನೋಡಾ.
ಅದೆಂತೆಂದಡೆ: ಮುಖ ಮಧ್ಯದಲ್ಲಿ ನೇತ್ರ, ನೇತ್ರ ಮಧ್ಯದಲ್ಲಿ ಮನಸ್ಸು,
ಮನೋಮಧ್ಯದಲ್ಲಿ ತಾನೆ ತಾನಲ್ಲದೆ ಮತ್ತೊಂದು ಸಾಧಕವಿಲ್ಲದದು
ನಿಜತಾರಕಬ್ರಹ್ಮಶಾಂಭವಮೂರ್ತಿಯ ನೋಡ–
ಇಂತು ನಿಜತಾರಕಬ್ರಹ್ಮಶಾಂಭವಮೂರ್ತಿಯ ಮೂರ್ತಿಗೊಂಡಿರ್ಪರು ನೋಡಾ
ಗುಹೇಶ್ವರಲಿಂಗದ ಹೃತ್ಕಮಲಮಧ್ಯದಲ್ಲಿ ಸಿದ್ಧರಾಮಯ್ಯ. ॥೧೦೪॥

೭೯೯

ಅಯ್ಯ ! ಪ್ರಾಣ, ಅಪಾನ, ವ್ಯಾನ, ಉದಾನ, ಸಮಾನ,
ನಾಗ, ಕೂರ್ಮ, ಕೃಕರ, ದೇವದತ್ತ, ಧನಂಜಯವೆಂಬ
ದಶವಾಯು ಪ್ರಾಣಗುಣಂಗಳ ನಷ್ಟವ ಮಾಡಿ
ಯಮ, ನಿಯಮ, ಆಸನ, ಪ್ರಾಣಾಯಾಮ, ಪ್ರತ್ಯಾಹಾರ,
ಧ್ಯಾನ, ಧಾರಣ, ಸಮಾಧಿಯೆಂಬ ಹಠಯೋಗ ಜಡಶೈವಮಾರ್ಗವನುಳಿದು,
ನಿರ್ಭ್ರಾಂತ, ನಿಶ್ಚಿಂತ, ನಿರ್ಗುಣಾನಂದಲೀಲೆಯನರಿದು, ಹಿಂದೆ ಹೇಳಿದ
ಸದ್ಭಕ್ತ–ಮಹೇಶ–ಪ್ರಸಾದಿಸ್ಥಲವ ಅಂಗವ ಮಾಡಿಕೊಂಡು
ಸರ್ವಾಂಗಲೋಚನಮೂರ್ತಿಯಾಗಿ ಪ್ರಭಾವಿಸುವ
ನಿಜಪ್ರಾಣಲಿಂಗಿಯಂತರಂಗದಲ್ಲಿ ಚಿನ್ಮಯ ಸ್ವರೂಪಲೀಲೆಯಿಂ
ಸಮಸ್ತ ತತ್ವಾನುಭಾವವನೊಳಗು ಮಾಡಿಕೊಂಡು
ಹದಿನಾಲ್ಕು ಸ್ಥಲಂಗಳ ಗರ್ಭೀಕರಿಸಿಕೊಂಡು
ಐದು ಸಾವಿರದ ನೂರ ಎಂಬತ್ತುನಾಲ್ಕು ಮಂತ್ರಮಾಲೆಗಳ ಪಿಡಿದುಕೊಂಡು
ಇಪ್ಪತ್ತುನಾಲ್ಕು ಸಕೀಲಗರ್ಭದಿಂ, ಬಂಗಾರ ಲೋಹವನೊಳಕೊಂಡಂತೆ,
ತನ್ನ ಸೋಂಕಿದವರೆಲ್ಲ ತನ್ನಂತೆಯೆಂಬ ಗುರುವಚನೋಕ್ತಿಪ್ರಮಾಣದಿಂದೆ
ಶಬ್ದದೊಳಗೆ ನಿಃಶಬ್ದವಡಗಿರ್ಪ ಹಾಂಗೆ ಏಕಸ್ವರೂಪಿನಿಂದೆ
ಯಜನಸ್ವರೂಪಮೂರ್ತಿ ಜಂಗಮಲಿಂಗವಾಗಿ ನೆಲಸಿರ್ಪುದು ನೋಡ !
. ನಿರವಯಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೧೦೫॥

೮೦೦

ಅಯ್ಯ ! ಪೂರ್ವವನಳಿದು ಪುನರ್ಜಾತನಾದ
ಸತ್ಯಸದ್ಧರ್ಮಸ್ವರೂಪ ತಚ್ಛಿಷ್ಯನು ಶ್ರೀಗುರುಲಿಂಗಜಂಗಮದ
ವೇಧಾ–ಮಂತ್ರ–ಕ್ರಿಯಾದೀಕ್ಷೆಯ ಪಡೆದು, ಅಷ್ಟಾವರಣದ ನೆಲೆಕಲೆಗಳ ತಿಳಿದು,
ಪಂಚಾಚಾರ ಮೊದಲಾಗಿ ಸರ್ವಾಚಾರ ಸಂಪತ್ತಿನ ವಿವರ ತಿಳಿದು,
ನೂರೊಂದು ಸ್ಥಲದ ಆಚರಣೆ–ಇನ್ನೂರಹದಿನಾರು ಸ್ಥಲದ ಸಂಬಂಧವನರಿದು,
ಷಟ್ಸ್ಥಲ ಮಾರ್ಗವಿಡಿದು, ಶ್ರೀಗುರುಲಿಂಗ ಜಂಗಮಕ್ಕೆ
ತನು–ಮನ–ಧನವಂಚನೆಯಿಲ್ಲದೆ ನಿರ್ವಂಚಕನಾಗಿ,
ಭಕ್ತಸ್ಥಲದಲ್ಲಿ ನಿಂದಡೆ ಸತ್ಯಶುದ್ಧ ಕಾಯಕ[ವ ಮಾಡಿ]
ಮಹೇಶ್ವರಸ್ಥಲದಲ್ಲಿ ನಿಂದಡೆ ಸತ್ಯಶುದ್ಧ ಭಿಕ್ಷವ ಮಾಡಿ, (ಬೇಡಿ?)
ಬಂದ ಪದಾರ್ಥವ ಸಮರ್ಪಿಸಿ, ಪರದ್ರವ್ಯದಲ್ಲಿ ರಿಣಭಾರನಾಗದೆ,
ಸತ್ಯಶುದ್ಧ ನಡೆನುಡಿಯಿಂದಾಚರಿಸಿ,
ಶ್ರದ್ಧಾದಿ ಸಮರಸಾಂತ್ಯಮಾದ ಸದ್ಭಕ್ತಿಯ ತಿಳಿದು
ಅನಾದಿಕುಳ ಸನ್ಮತವಾದ ದಶವಿಧ ಪಾದೋದಕ, ಏಕಾದಶ ಪ್ರಸಾದದ ವಿಚಾರ
ಮೊದಲಾದ ಅರ್ಪಿತಾವಧಾನವ,
ಪರಿಪೂರ್ಣಮಯ ಶ್ರೀಗು ರುಲಿಂಗಜಂಗಮಕರುಣಕಟಾಕ್ಷೆಯಿಂದ,
ಅಚ್ಚ ಪ್ರಸಾದಿಸ್ಥಲದ ಶರಣತ್ವವ ಪಡೆದು,
ಸತ್ಯಸದಾಚಾರವುಳ್ಳ ಸದ್ಗುರುಲಿಂಗಜಂಗಮದ ನಿಜನಿಷ್ಠತ್ವಮಂ ತಿಳಿದು,
ದಂತಧಾವನಕಡ್ಡಿ ಮೊದಲು ಕೌಪ ಕಟಿಸೂತ್ರ ಕಡೆಯಾದ ಸಮಸ್ತ ಪದಾರ್ಥವ
ಗುರು–ಲಿಂಗ–ಜಂಗಮಕ್ಕೆ ಸಮರ್ಪಿಸಿ, ಅವರೊಕ್ಕುದ ಹಾರೈಸಿ. ಕೊಂಡು
ಇಂತು ಅಂತರಂಗ ಪರಿಪೂರ್ಣವಾಗಿ ನಿಂದ ಸಮಯದಲ್ಲಿ,
ಸ್ವಯ–ಚರ–ಪರಲೀಲೆಯ ಧರಿಸಿ ಜಂಗಮಾಕೃತಿಯಿಂದ ಬಂದ
ಗುರುಲಿಂಗಜಂಗಮದ ವೃತ್ತಸ್ಥಾನವಾದ ಮೊಳಪಾದ ಪರಿಯಂತರವು
ತೊಳದು ಬಹುಗುಣಿಯಲ್ಲಿ ಮಡಗಿಕೊಂಡು,
ಹೊಸಮನೆ, ಹೊಸಧನ, ಧಾನ್ಯ ಭಾಂಡಭಾಜನ, ಹೊಸ ಅರುವೆ–ಆಭರಣ,
ಜನನಿಜಠರದಿಂದಾದ ಅಂಗಾಂಗ, ಕಾಯಿಪಲ್ಯ,
ಉಚಿತಕ್ರಿಯೆ ಮೊದಲಾಗಿ ಅರಿದಾಚರಿಸುವದು ನೋಡ !
ಆ ಮೇಲೆ ಗುರುಲಿಂಗಜಂಗಮದ ಪ್ರಕ್ಷಾಲನೆ ಮಾಡಿದ ಪಾದವನ್ನು
ಮೂರು ವೇಳೆ ಅಡಿಪಾದವ ಸ್ಪರ್ಶನವ ಮಾಡಿ, ನಾಲ್ಕನೆಯ ವೇಳ್ಯಕ್ಕೆ
ದಶಾಂಗುಲಿಗಳ ಒಂದು ವೇಳೆ ಸ್ಪರ್ಶನವ ಮಾಡಿದ
ಉದಕವನ್ನು ಭಾಂಡಭಾಜನದಲ್ಲಿ ತುಂಬಿ ಸ್ವಪಾಕವ ಮಾಡುವುದು.
ಆ ಸಮಯದಲ್ಲಿ ಬಿಂದುಮಾತ್ರ [ವಾದರೂ]

ಇಷ್ಟಲಿಂಗ ಬಾಹ್ಯವಾದ ಭವಿಜನ್ಮಾತ್ಮರಿಗೆ ಹಾಕಲಾಗದು.
ಇನ್ನು ಜಂಗಮದ ಅಂಗುಷ್ಠ ಎರಡು–ಅಂಗುಲಿ ಎಂಟರಲ್ಲಿ ತನ್ನ ತರ್ಜನಿ ಬೆರಳಿಂದ
ಮೊದಲಂತೆ ಪಾದೋದಕವ ಮಾಡಿ, ಬಟ್ಟಲಲ್ಲಿ ಮಡಗಿ,
ಪೂರ್ವದಲ್ಲಿ ಭಾಂಡದೊಳಗೆ ತುಂಬಿದ
ಗುರುಪಾದೋದಕದಿಂದ ವಿಭೂತಿ ಘಟ್ಟಿಯ ಅಭಿಷೇಕವ ಮಾಡಿ,
ಈ ಬಟ್ಟಲಲ್ಲಿ ಮಡಗಿದ ಲಿಂಗಪಾದೋದಕದಲ್ಲಿ ಮಿಶ್ರವ ಮಾಡಿ,
ಇಪ್ಪತ್ತೊಂದು ಪ್ರಣಮವ ಲಿಖಿಸಿ
ಶ್ರೀಗುರುಲಿಂಗಜಂಗಮವು ತಾನು ಮಂತ್ರಸ್ಮರಣೆಯಿಂದ
ಸ್ನಾನ–ಧೂಳನ–ಧಾರಣವ ಮಾಡಿ, ಲಿಂಗಾರ್ಚನೆ ಕ್ರಿಯೆಗಳ ಮುಗಿಸಿಕೊಂಡು,
ಆ ಮೇಲೆ ತೀರ್ಥವ ಪಡಕೊಂಬುವಂಥ ಲಿಂಗಭಕ್ತನು
ಆ ಜಂಗಮಲಿಂಗಮೂರ್ತಿಯ ಸಮ್ಮುಖದಲ್ಲಿ ಗದ್ದುಗೆಯ ರಚಿಸಿಕೊಂಡು,
ಅಷ್ಟಾಂಗಯುಕ್ತನಾಗಿ ಶರಣಾರ್ಥಿ ಸ್ವಾಮಿ ! ಜಂಗಮಲಿಂಗಾರ್ಚನೆಗೆ ಅಪ್ಪಣೆಯ
ಪಾಲಿಸಬೇಕೆಂದು ಬೆಸಗೊಂಡು,
ಆ ಗದ್ದುಗೆಯ ಮೇಲೆ ಮೂರ್ತವ ಮಾಡಿಕೊಂಡು
ಆ ಕ್ರಿಯಾಜಂಗಮಮೂರ್ತಿಯ ಕರಕಮಲದಲ್ಲಿ
ನೆಲಸಿರುವ ಪರಾತ್ಪರ ಜ್ಞಾನಜಂಗಮ ಲಿಂಗಮೂರ್ತಿಗೆ
ಅಷ್ಟವಿಧಾರ್ಚನೆ–ಷೋಡಶೋಪಚಾರಂಗಳ ಸಮರ್ಪಿಸಿ,
ಆ ಮೇಲೆ, ತನ್ನ ವಾಮಕರದಂಗುಲಿ ಮಧ್ಯದಲ್ಲಿ
ಷಡಕ್ಷರಂಗಳ ಲಿಖಿಸಿಕೊಂಡು ಅರ್ಚಿಸಿ,
ತನ್ನ ಹೃನ್ಮಂದಿರಾಲಯದಲ್ಲಿ ನೆಲಸಿರುವ
ಜ್ಯೋತಿರ್ಮಯ ಇಷ್ಟಮಹಾಲಿಂಗವ ನಿರೀಕ್ಷಿಸಿ
ಆ ಪರಶಿವಜಂಗಮಲಿಂಗದೇವನ ಚರಣಾಂಗುಷ್ಠವ, ತನ್ನ ವಾಮಕರಸ್ಥಲದಲ್ಲಿ
ಸುತ್ತು ಚಿತ್ತಾನಂದ ನಿತ್ಯಪರಿಪೂರ್ಣ ಅವಿರಳ ಪರಂಜ್ಯೋತಿ ಸ್ವರೂಪವಾದ
ಪ್ರಾಣಲಿಂಗವೆಂದು ಭಾವಿಸಿ ಅಷ್ಟವಿಧಾರ್ಚನೆ
ಷೋಡಶೋಪಚಾರ ಕ್ರಿಯಗಳ ಮಾಡಿ,
ಆಮೇಲೆ ಇಷ್ಟಲಿಂಗಜಪಪ್ರಣಮ ಒಂದು ವೇಳೆ
ಪ್ರಾಣಲಿಂಗ ಜಪಪ್ರಣಮ ಒಂದು ವೇಳೆ
ಭಾವಲಿಂಗ ಜಪಪ್ರಣಮ ಒಂದು ವೇಳೆ ಪ್ರದಕ್ಷಿಣವ ಮಾಡಿ
ಜಂಗಮಸ್ತೋತ್ರದಿಂದ ಶರಣು ಮಾಡಿ ಪೂಜೆಯನಿಳುಹಿ, ಪಾತ್ರೆಯಲ್ಲಿರುವ
ಗುರುಪಾದೋದಕದಲ್ಲಿ ಬಿಂದುಯುಕ್ತವಾಗಿ ಮೂಲ ಪ್ರಣಮವ ಲಿಖಿಸಿ
ಬಲದಂಗುಷ್ಠದಲ್ಲಿ ನೀಡುವಾಗ ಷಡಕ್ಷರಿಮಂತ್ರವ ಆರು ವೇಳೆ ಸ್ಮರಿಸಿ,
ನೀಡುವಾಗ ಅಲ್ಲಿ ಅನಾದಿಗುರುವೆಂದು ಭಾವಿಸುವುದು.

ಎಡದಂಗುಷ್ಠದ ಮೇಲೆ ನೀಡುವಾಗ ಪಂಚಾಕ್ಷರವ ಐದು ವೇಳೆ ಸ್ಮರಿಸಿ,
ನೀಡುವಾಗ ಅಲ್ಲಿ ಅನಾದಿಲಿಂಗವೆಂದು ಭಾವಿಸುವುದು.
ಎರಡಂಗುಷ್ಠದ ಮಧ್ಯದಲ್ಲಿ ನೀಡುವಾಗ ಒಂಬತ್ತಕ್ಷರವ ಒಂದು ವೇಳೆ ಸ್ಮರಿಸಿ,
ನೀಡುವಾಗ ಅಲ್ಲಿ ತ್ರಿಕೂಟಸಂಗಮ ಅನಾದಿಜಂಗಮವೆಂದು ಭಾವಿಸುವುದು.
ಈ ಪ್ರಕಾರದಲ್ಲಿ ನೀಡಿದ ಮೇಲೆ ದ್ರವವನಾರಿಸಿ, ಭಸ್ಮಧಾರಣವ ಮಾಡಿ,
ಒಂದೆ ಪುಷ್ಪವ ಧರಿಸಿ, ನಿರಂಜನ ಪೂಜೆಯಿಂದ ಪ್ರದಕ್ಷಣವ ಮಾಡಿ, ನಮಸ್ಕರಿಸಿ,
ಆ ತೀರ್ಥದ ಬಟ್ಟಲೆತ್ತಿ ಆ ಜಂಗಮಲಿಂಗಕ್ಕೆ ಶರಣಾರ್ಥಿಯೆಂದು ಅಭಿವಂದಿಸಿ.
ಅವರು ಸಲಿಸಿದ ಮೇಲೆ ತಾನು ಗದ್ದುಗೆಯ ಬಿಟ್ಟೆದ್ದು,
ಪರಾತ್ಪರ ಬ್ರಹ್ಮಸ್ವರೂಪ ಜಂಗಮ ತೀರ್ಥದ ಸ್ತೋತ್ರವ ಮಾಡಿ,
ಅಷ್ಟಾಂಗ ಹೊಂದಿ ಶರಣುಹೊಕ್ಕು,
ನಿಮ್ಮ ಪ್ರಸಾದೋದಕಕ್ಕೆ ನಿರೂಪವ ಪಾಲಿಸಬೇಕು ಸ್ವಾಮಿ ! ಎಂದು ಬೇಡಿಕೊಂಡು
ಬಂದು ಮೊದಲ ಹಾಂಗೆ ಗದ್ದುಗೆಯ ಮೇಲೆ ಮೂರ್ತವ ಮಾಡಿಕೊಂಡು
ಆ ಜಂಗಮ ಮೂರ್ತಿಗಳು ಸಲಿಸಿದೋಪಾದಿಯಲ್ಲಿ ತಾನು ಸಲಿಸುವುದು.
ಆಮೇಲೆ ಷಟ್ಸ್ಥಲಭಕ್ತ ಮಹೇಶ್ವರರು ಅದೇ ರೀತಿಯಲ್ಲಿ ಸಲಿಸುವುದು.
ಉಳಿದ ಷಟ್ಸ್ಥಲಮಾರ್ಗವರಿಯದ ಲಿಂಗಧಾರಕಶಿಶುವಾಗಲಿ,
ಶಕ್ತಿಯಾಗಲಿ, ದೊಡ್ಡವರಾಗಲಿ
ಆ ಗದ್ದುಗೆಯ ತೆಗೆದು ಲಿಂಗಕ್ಕೆ ಅರ್ಪಿಸಿಕೊಳ್ಳಬೇಕಲ್ಲದೆ ಬಟ್ಟಲೆತ್ತಲಾಗದು.
ಅದೇನು ಕಾರಣವೆಂದಡೆ, ಅವರಿಗೆ ಇಪ್ಪತ್ತೊಂದು ದೀಕ್ಷೆ, ಷಟ್ಸ್ಥಲಮಾರ್ಗ,
ಸರ್ವಾಚಾರ ಸಂಪತ್ತಿನಾಚರಣೆ ಮುಂದಿದ್ದರಿಂದ ಅವರು ಬಟ್ಟಲೆತ್ತಲಾಗದು.
ಹೀಂಗೆ ಸಮಸ್ತರು ಸಲಿಸಿದ ಮೇಲೆ ಕೊಟ್ಟು–ಕೊಂಡ, ಭಕ್ತ–ಜಂಗಮವು
ಇರ್ವರು ಕೂಡಿ ಮುಕ್ತಾಯವ ಮಾಡಿದಲ್ಲಿಗೆ ದಶವಿಧ ಪಾದೋದಕವಾಗುವುದು.
ಆ ಮೇಲೆ ಗುರುಪಾದೋದಕದಿಂದ ಪಾಕವ ಮಾಡಿದ ಭಾಂಡಭಾಜನಂಗಳು
ತಾಂಬೂಲ ಪದಾರ್ಥ ಮುಂತಾಗಿ ಇರ್ವರು ಕೂಡಿ
ಮೌನಮಂತ್ರ ಧ್ಯಾನದಿಂದ ಹಸ್ತಸ್ಪರ್ಶನವ ಮಾಡಿ,
ಶುದ್ಧ ಪ್ರಸಾದವೆಂದು ಭಾವಿಸಿ, ಬಹುಸುಯಿದಾನದಿಂದ
ಸಮಸ್ತ ಜಂಗಮಭಕ್ತ ಮಹೇಶ್ವರ ಶರಣಗಣಾರಾಧ್ಯರಿಗೆ ಎಡೆಮಾಡಿ,
ಅಷ್ಟಾಂಗ ಹೊಂದಿ, ಎಡಬಲ ಗಣತಿಂಥಿಣಿಯ ನೋಡಿ, ನಿರೀಕ್ಷಿಸಿ,
ಶರಣಾರ್ಥಿ ! ಸ್ವಾಮಿ ! ಮಹಾಲಿಂಗಾರ್ಪಿತವ ಮಾಡಬೇಕೆಂದು ಅಭಿವಂದಿಸಿ,
ಪತಿವ್ರತತ್ವದಿಂದ ಜಂಗಮಕ್ಕೆ ನಿರ್ವಂಚಕನಾಗಿ,
ಭಕ್ತ–ಜಂಗಮವೆಂಬ ಉಭಯನಾಮವಳಿದು ಕ್ಷೀರ ಕ್ಷೀರ ಬೆರೆತಂತೆ ನಿರಾಕಾರ–
ನಿಶ್ಶಬ್ದಲೀಲೆ ಪರಿಯಂತರವು ಶ್ರೀಗುರುಲಿಂಗಜಂಗಮಪಾದೋದಕಪ್ರಸಾದವ
ಸಪ್ತವಿಧಭಕ್ತಿಯಿಂದ ಸಾವಧಾನಿಯಾಗಿ ಆಚರಿಸುವಾತನೆ ಜಂಗಮಭಕ್ತನಾದ
ಅಚ್ಚಪ್ರಸಾದಿಯೆಂಬೆ ಕಾಣಾ ! ಗುಹೇಶ್ವರಲಿಂಗದಲ್ಲಿ ಚೆನ್ನಬಸವಣ್ಣ. ॥ ೧೦೬ ॥

೮೦೧

ಅಯ್ಯ, ಮಣ್ಣಿಂಗೆ ಹೊಡೆದಾಡುವಾತನ ಗುರುವೆಂಬೆನೆ? ಆತ ಗುರುವಲ್ಲ.
ಹೆಣ್ಣಿಂಗೆ ಹೊಡೆದಾಡುವಂತಾ [ಗೆ?] ಲಿಂಗವೆಂಬೆನೆ ? ಅದು ಲಿಂಗವಲ್ಲ.
ಹೊನ್ನಿಂಗೆ ಹೊಡೆದಾಡುವಾತನ ಜಂಗಮವೆಂಬೆನೆ ? ಆತ ಜಂಗಮವಲ್ಲ.
ಈ ತ್ರಿವಿಧಮಲಕ್ಕೆ ಹೊಡೆದಾಡುವಾತನ ಶರಣನೆಂಬೆನೆ ? ಆತ ಶರಣನಲ್ಲ ನೋಡಾ.
ಈ ವಿಚಾರವನರಿದು, ಮಲತ್ರಯಂಗಳ ಸರ್ವಾವಸ್ಥೆಯಲ್ಲಿ ಹೊದ್ದಲೀಯದೆ
ಗೌರವ ಬುದ್ಧಿ ಲಿಂಗಲೀಯ ಜಂಗಮಾನುಭಾವ ಸರ್ವಾಚಾರಸಂಪತ್ತಿನಾಚರಣೆಯ
ಶ್ರುತಿ – ಗುರು – ಸ್ವಾನುಭಾವದಿಂದರಿದು ಆಚರಿಸಿದಡೆ,
ಗುಹೇಶ್ವರಲಿಂಗದಲ್ಲಿ ಪರಾತ್ಪರಗುರುಲಿಂಗಜಂಗಮಶರಣನೆಂಬೆ ನೋಡ
ಚೆನ್ನಬಸವಣ್ಣ. ॥ ೧೦೭ ॥

೮೦೨

ಅಯ್ಯ ! ಮುಂದೆ ಮರ್ತ್ಯಲೋಕದ ಮಹಾಗಣಂಗಳು
ಸದ್ಭಕ್ತಿ, ಸದಾಚಾರ, ಸತ್ಕ್ರಿಯಾ, ಸಮ್ಯಜ್ಞಾನ,
ಆಜ್ಞಾದೀಕ್ಷೆ ಮೊದಲಾದ ಇಪ್ಪತ್ತೊಂದು ದೀಕ್ಷೆಯ ವಿಚಾರ,
ತ್ರಿವಿಧ ಸ್ಥಲ – ಷಟ್ಸ್ಥಲ
ದಶವಿಧಪಾದೋದಕ, ಏಕಾದಶಪ್ರಸಾದ, ಷೋಡಶಾವರಣ,
ನೂರೆಂಟುಸಕೀಲು ಮೊದಲಾದ ಸಮಸ್ತಸಕೀಲದ ಅರ್ಪಿತ – ಅವಧಾನಂಗಳು,
ಮೂಲಪ್ರಣಮ ಮೊದಲಾಗಿ ಮಹಾಮಂತ್ರಗಳು,
ಸರ್ವಾಚಾರ ಸಂಪತ್ತಿನ ಲಿಂಗಾನುಭಾವದ ನಡೆ – ನುಡಿಯ ವಿಚಾರವು
ಷಡ್ವಿಧಶೀಲ, ಷಡ್ವಿಧವ್ರತ, ಷಡ್ವಿಧನೇಮದ ಕಲೆನೆಲೆಯ ಸನ್ಮಾರ್ಗವು,
ಇಂತೀ ಸ್ವಸ್ವರೂಪುನಿಲುಕಡೆಯ
ನಿಷ್ಕಲಂಕ ಪರಶಿವಮೂರ್ತಿ ಸದ್ಗುರು ಲಿಂಗಜಂಗಮದಿಂ ಪಡೆದು
ಪರುಷಮುಟ್ಟಿದ ಲೋಹ ಬಂಗಾರವಾಗಿ ಮರಳಿ ಲೋಹವಾಗದಂತೆ,
ಪಾವನಾರ್ಥವಾಗಿ ಸ್ವಯ – ಚರ – ಪರ, ಆದಿ – ಅಂತ್ಯ – ಸೇವ್ಯಸ್ಥಲ ಮೊದಲಾದ
ಷಟ್ಸ್ಥಲಮಾರ್ಗವಿಡಿದಾಚರಿಸುವಲ್ಲಿ ಭಕ್ತಮಾಹೇಶ್ವರ ಶರಣಗಣಂಗಳು
ಸಮುಪಜ್ಞಿಯಲ್ಲಿ
ಸುಗಂಧ, ಸುರಸ, ಸುರೂಪು, ಸುಸ್ಪರ್ಶನ ಸುಶಬ್ದ, [ಸುಪರಿಣಾಮ],
ಮಧುರ, ಒಗರು, ಕಾರ, ಹುಳಿ, ಕಹಿ, ಲವಣ, ಪಂಚಾಮೃತ
ಮೊದಲಾದ ಪದಾರ್ಥದ
ಪೂರ್ವಾಶ್ರಯವ ಕಳೆದು, ಮಹಾಘನಲಿಂಗಮುಖದಲ್ಲಿ
ಶುದ್ಧ – ಸಿದ್ಧ – ಪ್ರಸಿದ್ಧ, ರೂಪು – ರುಚಿ – ತೃಪ್ತಿಗಳು ಮಹಾಮಂತ್ರ

ಧ್ಯಾನದಿಂದ ಸಮರ್ಪಿಸಿ
ಆ ಲಿಂಗದ ಗರ್ಭದಿ ನೆಲಸಿರ್ಪ ನಿರಂಜನಜಂಗಮದಿಂ ಮಹಾಪ್ರಸಾದವ ಪಡೆದು
ತಾನೆ ಪ್ರಾಣಲಿಂಗವೆಂದು ಎರಡಳಿದು,
ಪರಿಶಿವಲಿಂಗಲೀಲೆಯಿಂ ಭೋಗಿಸುವ ಸಮಪಙ್ಕ್ತಿಯ ಮಧ್ಯದಲ್ಲಿ
ಆವ ಗಣಂಗಳಾದರು ಸರಿಯೆ, ಪ್ರಸಾದ ನಮಗೆ ಹೆಚ್ಚಾಯಿತ್ತೆಂದು
ತ್ರಿವಿಧದೀಕ್ಷಾಹೀನವಾದ ಉಪಾಧಿಲಿಂಗಭಕ್ತಂಗೆ
ಒಲ್ಮೆಯಿಂದ ಶರಣಾಗೆಂದು ಕೊಡುವವನೊಬ್ಬ ಅಯೋಗ್ಯನು !
ಅಥವಾ ಗುರುಮಾರ್ಗದಾಚರಣೆಯ ತಿಳಿಯದೆ ಕೊಟ್ಟಲ್ಲಿ,
ಇಂತು ಕೊಂಡ ಭಕ್ತನು ಬಹುನಿಜದಿಂದ ಆ ಪ್ರಸಾದವೆ–
-ಪ್ರಾಣವಾಗಿದ್ದುದ ನೋಡಿ
ಮುಂದೆ ಷಟ್ಸ್ಥಲಲಿಂಗಾನುಭಾವ ಸದ್ಭಕ್ತ ಶರಣಗಣಂಗಳು
ಕೊಟ್ಟಾತಂಗೆ ಇಂತು ಕೊಡದಂತೆ ಆಜ್ಞೆಯ ಮಾಡಿ,
ಕೊಂಡಂಥವರ ದುರ್ಗುಣಗಳ ಬಿಡಿಸಿ
ವೇಧಾಮಂತ್ರಕ್ರಿಯೆ ಹಸ್ತಮಸ್ತಕಸಂಯೋಗ ಮೊದಲಾದ
ಇಪ್ಪತ್ತೊಂದು ದೀಕ್ಷೆಯ ಸದ್ಗುರುವಿನಿಂ ಮಾಡಿಸಿ ಸದಾಚಾರವ ಬೋಧಿಸಿ,
ಅಷ್ಟಾವರಣದ ಗೊತ್ತ ಸರ್ವಾಂಗಲಿಂಗದಿ ತೋರಿ,
ಅನಾದಿಜಂಗಮಪ್ರಸಿದ್ಧ ಪ್ರಸಾದ ಪಾದೋದಕವ ಕೊಟ್ಟುಕೊಂಬುದೆ
ಸದಾಚಾರ–ಸನ್ಮಾರ್ಗ ನೋಡ ! ಗುಹೇಶ್ವರಲಿಂಗಕ್ಕೆ ಚೆನ್ನಬಸವಣ್ಣ. ॥೧೦೮॥

೮೦೩

ಅಯ್ಯ ! ಯಂತ್ರಗಾರನಲ್ಲ ಮಂತ್ರಗಾರನಲ್ಲ ನೋಡ !
ನಿರವಯಶೂನ್ಯಲಿಂಗಮೂರ್ತಿ
ಕುಳನಲ್ಲ ವ್ಯಾಕುಳನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಪಾಶನಲ್ಲ ಪಾಶಬದ್ಧನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಕಾಲನಲ್ಲ ಕರ್ಮನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಅಂಗವಿಕಾರಿಯಲ್ಲ ಮನವಿಕಾರಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸೂಯನಲ್ಲ ಅಸೂಯನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಜಪದವನಲ್ಲ ತಪದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ವೈದಿಕನಲ್ಲ ವ್ಯವಹಾರಿಕನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸಿದ್ಧನಲ್ಲ ಪ್ರಸಿದ್ಧನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸುಖಿಯಲ್ಲ ದುಃಖಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಪಾಪಿಯಲ್ಲ ಕೋಪಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ

ಕರ್ಮಿಯಲ್ಲ ಧರ್ಮಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಇಂತು ಉಭಯವಳಿದು ಸಂಗನಬಸವಣ್ಣನ ಪಂಚಪರುಷಮೂರ್ತಿಯಾಗಿ ಬೆಳಗುವ
ಜ್ಯೋತಿ ತಾನೆ ನೋಡ ಗುಹೇಶ್ವರಲಿಂಗವು, ಚೆನ್ನಬಸವಣ್ಣ. ॥೧೦೯॥

೮೦೪

ಅಯ್ಯ ಲಿಂಗಾಂಗ ಸಮರಸ ಹೇಗುಂಟೆಂದರೆ:
ಸುಚಿತ್ತಕಮಲ ಮೊದಲಾಗಿ ಆಯಾಯ ಕರಸ್ಥಲದಲ್ಲಿ ಮೂರ್ತಗೊಂಡಿರುವ
ಸುಜ್ಞಾನಜಂಗಮ ಸ್ವರೂಪನಾದ ಇಷ್ಟ ಮಹಾಲಿಂಗದ ಗರ್ಭದಲ್ಲಿ
ತನ್ನಂಗವ ಬಿಟ್ಟು; ಎರಡು ನೇತ್ರ ಒಂದಾದ ಲಲಾಟನೇತ್ರದಲ್ಲಿ
ಇಷ್ಟಲಿಂಗವನು ಮುಳುಗಿಸುವುದೀಗ ಲಿಂಗಾಂಗಸಂಗಸಮರಸವು ನೋಡಾ.
ಆ ಇಷ್ಟ ಮಹಾಲಿಂಗ ನೇತ್ರದರ್ಪಣದಲ್ಲಿ ಪ್ರತಿಬಿಂಬವಾಗಿ
ಮನೋನೇತ್ರಕ್ಕೆ ಒಂದೆರಡಾಗಿ ಕಾಣಲ್ಪಡುವುದೀಗ ಪ್ರಾಣಲಿಂಗವು.
ಆ ಪ್ರಾಣಲಿಂಗಹಸ್ತಂಗಳೆಂಬ ಎರಡರಲ್ಲಿ
ನೇತ್ರದ್ವಯವೆಂಬ ಕುಚಂಗಳೆರಡ ಹಿಡಿವುದೀಗ ಲಿಂಗಾಂಗಸಂಗಸಮರಸವು [ನೋಡಾ]
ರೂಪು ರೇಖೆವಿಭ್ರಮ ವಿಲಾಸಕಳಾಲಾವಣ್ಯಸ್ವರೂಪವಾದ ಹರಶಿವ
ಬ್ರಹ್ಮಮೂರ್ತಿಯ
ಮುದ್ದು ಮುಖದ ಅಧಾರದಲ್ಲಿ ಓಂಕಾರನಾದಾಮೃತವ ತಾ ಚುಂಬನ ಮಾಡಲ್ಕೆ
ಚಿತ್‌ಶಕ್ತಿಸ್ವರೂಪಮಪ್ಪ ತನ್ನ ಮುದ್ದುಮುಖದ ಅಧಾರದಲ್ಲಿ ಹುಟ್ಟಿದ
ನಕಾರಾದಿ ಪಂಚಪ್ರಣಮಂಗಳು ಆ ಪಂಚಬ್ರಹ್ಮ ಚುಂಬನವ ಮಾಡಲ್ಕೆ
ಇದು ಲಿಂಗಾಂಗ ಸಮರಸವು. ಇದು ಶರಣಸತಿ ಲಿಂಗಪತಿ ನ್ಯಾಯವು.
ಇದು ಶ್ರೀ (ತ್ರಿ?)ತನುವ ಲಿಂಗಕ್ಕರ್ಪಿಸುವ ಕ್ರಮವು.
ತನ್ನಲ್ಲಿ ತನ್ನ ತೋರಿ ನನ್ನಲ್ಲಿ ನನ್ನ ತೋರಿದನಾಗಿ
ನಾನು ನೀನೆಂಬುದಿಲ್ಲ ನೀನು ನಾನೆಂಬುದಿಲ್ಲ, ತಾನೆ ತಾನಾದುದು.
ಬಯಲು ಬಯಲು ಕೂಡಿದ ಹಾಗೆ, ಮಾತು ಮಾತ ಕಲಿವ ಹಾಗೆ
ಪರಶಿವಲಿಂಗದಲ್ಲಿ ನಿಜದೃಷ್ಟಿ ಕರಿಗೊಂಡ ಮೇಲೆ
ಗುಹ್ಯಕ್ಕೆ ಗುಹ್ಯ ಗೋಪ್ಯಕ್ಕೆ ಗೋಪ್ಯ ರಹಸ್ಯಕ್ಕೆ ರಹಸ್ಯ.
ಇದ ಗುಹೇಶ್ವರನೆ ಬಲ್ಲನಲ್ಲದೆ, ಕಣ್ಣುಗೆಟ್ಟಣ್ಣಗಳೆತ್ತ ಬಲ್ಲರು ನೋಡಾ ? ॥೧೧೦॥

೮೦೫

ಅಯ್ಯ ವಿಶ್ವತೋಚಕ್ಷುರುತ' ಎಂದುದಾಗಿ,
ಜಗವೆಲ್ಲ ನೇತ್ರಂಗಳಾಗಿರ್ಪನು ಶಿವನು.
ಜಗವೆಲ್ಲ ನೇತ್ರವಾಗಿದ್ದರೆ, ನೇತ್ರದೊಳಗುತ್ತಮ ಮಧ್ಯಮ ಕನಿಷ್ಠಂಗಳು

ಏಕಾದವು ? ಎಂದಡೆ ಹೇಳಿಹೆವು ಕೇಳಿರಯ್ಯ:
ನೇತ್ರಕ್ಕೆ ನೇತ್ರವಾದ ಜಗನೇತ್ರಕ್ಕೆ ಪ್ರಕಾಶನಾಗಿ ತನ್ನ ತೋರದೆ ಇದ್ದಂಥಾ,
ಶ್ರೀಗುರು ಕರುಣಾಕಟಾಕ್ಷೆಯಿಂದ ಉದಯವಾದ
ಇಷ್ಟಮಹಾಜ್ಯೋತಿರ್ಲಿಂಗವನು ನೋಡಿದ ನೇತ್ರವೆ ಲಿಂಗನೇತ್ರವು.
ಅದೇ ಸದ್ಧರ್ಮಸ್ವರೂಪವಾದ ಉತ್ತಮವೆನಿಸುವುದು.
ಅಯ್ಯಾ ಖಗಮೃಗ ಫಣಿಕೀಟಕಾದಿಗಳ ನೇತ್ರಂಗಳು ಉಭಯಕರ್ಮಕ್ಕೆ ಒಳಗಿಲ್ಲಾಗಿ
ದೃಷ್ಟಿದೋಷವಿಲ್ಲಾಗಿ ಅದು ಮಧ್ಯಮವೆನಿಸುವುದು
ಅಯ್ಯಾ ಇಷ್ಟಮಹಾಜ್ಯೋತಿರ್ಲಿಂಗಬಾಹ್ಯವಾಗಿ
ಪಂಚಮಹಾಪಾತಕ ಸೂತಕಂಗಳಲ್ಲಿ ವರ್ತಿಸುವ
ಅಪಾತ್ರಜೀವಿಗಳಾದ ಭವಿಗಳ ನೇತ್ರಂಗಳು ಉಭಯಕ್ಕೆ ಅನುಕೂಲವಾದ ಕಾರಣ
ಚರ್ಮಚಕ್ಷುವೆಂದು, ತನ್ನತಾನರಿಯದ ಗಾಡಾಂಧಕಾರವೆಂದು
ಮೀನುಗಳೆಂದು ವಿಷನೇತ್ರವೆಂದು
ಮನ್ಮಥನ ಕೈಗೆ ಸಿಲುಕಿದ ನೀಲೋತ್ಪಲ ಬಾಣವೆಂದು, ತಾಮಸಾಗ್ನಿಯೆಂದು
ಕುರೂಪದ ನೇತ್ರೇಂದ್ರಿಯವೆಂದು, ಶಿವಾಚಾರ ಸದ್ಧರ್ಮಿಗಳ ನಿಂದಿಸುವ
ಮಹಾಪಾತಕ ದೃಷ್ಟಿಯೆಂದು ಹೇಳಲ್ಪಟ್ಟಿತ್ತು.
ಇಷ್ಟಲಿಂಗವಿಲ್ಲಾದ ಕಾರಣ ಕನಿಷ್ಠಚಕ್ಷುವೆಂದುದು ನೋಡಾ ಅಯ್ಯ.
ಅದರಿಂದ ಸದ್ಭಕ್ತ ಶರಣಗಣಂಗಳು ಅರ್ಚನೆ ಅರ್ಪಿತದ್ರುವ್ಯವ ಕೊಡದೆ,
ಅವರೊಡನೆ ಸಂಭಾಷಣೆ ದರ್ಶನ ಸ್ಪರ್ಶನವ ಮಾಡಲಿಲ್ಲ ನೋಡಾ
ಗುಹೇಶ್ವರಲಿಂಗದಲ್ಲಿ ಸಿದ್ಧರಾಮಯ್ಯ. ॥೧೧೧॥

೮೦೬

ಅಯ್ಯ ! ಶ್ವೇತ, ಪೀತ, ಹರಿತ, ಮಾಂಜಿಷ್ಠ, ಕಪೋತ, ಮಾಣಿಕ್ಯ,
ಹಂಡಬಂಡ, ಚಿತ್ರ ವಿಚಿತ್ರ, ಮೊದಲಾದ ಪಶುಗಳ ಮಧ್ಯದಲ್ಲಿ ಕ್ಷೀರ !:
ಕ್ಷೀರ ಮಧ್ಯದಲ್ಲಿ ದಧಿ, ತಕ್ರ, ನವನೀತ, ಘೃತ, ರುಚಿ, ಚೇತನವಡಗಿರ್ಪಂತೆ,
ಸಿಂಪಿಯ ಮಧ್ಯದಲ್ಲಿ ಚಿಜ್ಜಲ ಸ್ವಾತಿಮಿಂಚಿನ ಪ್ರಕಾಶಕ್ಕೆ ಘಟ್ಟಿಗೊಂಡು
ಜಲರೂಪವಳಿದು ನಿರಾಕಾರವಾಗಿರ್ಪಂತೆ
ಸಮಸ್ತ ಬೀಜಮಧ್ಯದಲ್ಲಿ ವೃಕ್ಷಂಗಳಡಗಿರ್ಪಂತೆ
ವೃಕ್ಷಂಗಳ ಮಧ್ಯದಲ್ಲಿ ಬೀಜಂಗಳಡಗಿರ್ಪಂತೆ
ಸದ್ಭಕ್ತ ಶಿವಶರಣಗಣಂಗಳ ಮಧ್ಯದಲ್ಲಿ ಗೋಪ್ಯವಾಗಿರ್ದು
ಸಮಸ್ತ ಕುಲ – ಛಲ – ಮತಭ್ರಮಿತಂಗಳಿಂದ ತೊಳಲುವ
ವೇದಾಂತಿ – ಸಿದ್ಧಾಂತಿ – ಭಿನ್ನಯೋಗಿ ಮೊದಲಾದ ಅದ್ವೈತಜಡಾತ್ಮರ ಕಣ್ಣಿಂಗೆ
ಅಗೋಚರವಾಗಿರ್ಪುದು ನೋಡ ! ನಿರವಯಶೂನ್ಯಮೂರ್ತಿ ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೧೧೨॥

೮೦೭

ಅಯ್ಯ ! ಸಗುಣಿಯಲ್ಲ ನಿರ್ಗುಣಿಯಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಪರಮನಲ್ಲ ಜೀವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಅಹುದೆನ್ನ ಅಲ್ಲವೆನ್ನ ನೋಡ ! ನಿರವಯಶೂನ್ಯಲಿಂಗಮೂರ್ತಿ
ನಾನು ಎನ್ನ ನೀನು ಎನ್ನ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸೂಕ್ಷ್ಮನಲ್ಲ ಸ್ಥೂಲನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಯೋಗದವನಲ್ಲ ಭೋಗದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಮಾಡುವೆ [ನೆನ್ನ] ಮಾಡಿಸಿಕೊಂಬೆನೆನ್ನ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸುಶಬ್ದದವನಲ್ಲ ಕುಶಬ್ದದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸುಸ್ಪರ್ಶನದವನಲ್ಲ ಕುಸ್ಪರ್ಶನದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸುರೂಪದವನಲ್ಲ ಕುರೂಪದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸುರುಚಿಯವನಲ್ಲ ಕುರುಚಿಯವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಸುಗಂಧದವನಲ್ಲ ದುರ್ಗಂಧದವನಲ್ಲ ನೋಡ ! ನಿರವಯಶೂನ್ಯಲಿಂಗಮೂರ್ತಿ
ಇಂತು ಉಭಯವಳಿದು ಸಂಗನಬಸವಣ್ಣನ ಕರ–ಮನ–ಭಾವಂಗಳಲ್ಲಿ
ಬೆಳಗುವ ಪರಂಜ್ಯೋತಿ ತಾನೆ ನೋಡ ! ಗುಹೇಶ್ವರಲಿಂಗವು
ಚೆನ್ನಬಸವಣ್ಣ. ॥೧೧೩॥

೮೦೮

ಅಯ್ಯ ಸತ್ಕ್ರಿಯಾಸಮ್ಯಜ್ಞಾನವುಂಟಾದಡೆ ಸದಾಚಾರಸದ್ಭಕ್ತಿ ಉಂಟೆಂಬೆ.
ಸದಾಚಾರ ಸದ್ಭಕ್ತಿ ಸತ್ಕ್ರಿಯಾ ಸಮ್ಯಜ್ಞಾನ [ಸತ್ಯ] ನಡೆನುಡಿ ಒಂದಾದಡೆ
ಆದಿ–ಅನಾದಿಯಿಂದತ್ತತ್ತ ಮೀರಿ ತೋರುವ,
ಪರಿಪೂರ್ಣ ಪರಮಾನಂದ ಪರಬ್ರಹ್ಮ ಗುರುಲಿಂಗಜಂಗಮವೆಂಬೆ ನೋಡಾ.
ಇಂತು–ಸದಾಚಾರ, ಸದ್ಭಕ್ತಿ, ಸತ್ಕ್ರಿಯಾ, ಸಮ್ಯಜ್ಞಾನ,
ಸತ್ಯನಡೆ ನುಡಿಯಿಲ್ಲವಾದಡೆ
ಗುಹೇಶ್ವರಲಿಂಗಕ್ಕೆ ದೂರ ಕಾಣಾ ಚೆನ್ನಬಸವಣ್ಣ. ॥೧೧೪॥

೮೦೯

ಅಯ್ಯ, ಸತ್ಯವ ನುಡಿಯದ, ಸದಾಚಾರದಲ್ಲಿ ನಡೆಯದ
ಸದ್ಭಕ್ತಿಯ ಹಿಡಿಯದ, ನಿಜಮುಕ್ತಿಯ ಪಡೆಯದ
ಸತ್ಕ್ರಿಯವ ಸಾರದ ಸಮ್ಯಜ್ಞಾನವ ಮುಟ್ಟದ:
ಸುಡು ಸುಡು–ಈ ವೇಷದ ಭಾಷೆಯ ನೋಡಿ
ಗುಹೇಶ್ವರಲಿಂಗವು ನಗುತ್ತೈದಾನೆ ಕಾಣಾ ಚೆನ್ನಬಸವಣ್ಣಾ. ॥೧೧೫॥

೮೧೦

ಅಯ್ಯ ! ಸದ್ಭಕ್ತ – ಮಹೇಶ್ವರ – ಪ್ರಸಾದಿ –
ಪ್ರಾಣಲಿಂಗಿ – ಶರಣ – ಐಕ್ಯ – ನಿರಾಲಂಬಸ್ಥಲ ಮೊದಲಾದ
ಸಮಸ್ತಸ್ಥಲಂಗಳನರಿದು ಮರದು, ಮೇಲಾದ
ನಿರವಯಶೂನ್ಯಸ್ಥಲದಲ್ಲಿ ಪ್ರಭಾವಿಸುವ ಮೂರ್ತಿಯ ಇರವೆಂತೆಂದಡೆ –
ಅಜ್ಞಾನಮಾಯಾಸಂಸಾರ ಪ್ರಪಂಚೆಂಬ ಪಾಶದಲ್ಲಿ ಬಿದ್ದು ತೊಳಲುವ
ಜಡಜೀವರಿಗೆ ಮರೆಯಾಗಿ, ಕಣ್ಣುಮನ ಭಾವಂಗಳಿಗೆ ಗೋಚರವಿಲ್ಲದೆ
ಕ್ರಿಯಾಕಾಶ – ಜ್ಞಾನಾಕಾಶ – ಭಾವಾಕಾಶ – ಪಿಂಡಾಕಾಶ – ಬಿಂದ್ವಾಕಾಶ –
ಚಿದಾಕಾಶ – ಮಹದಾಕಾಶಮಧ್ಯದಲ್ಲಿ ಸಿಡಿಲುಮಿಂಚು ಅಭ್ರಚ್ಛಾಯೆಯಂತೆ,
ಇಕ್ಷು – ಲವಣ – ಸರ್ಪಿ – ದಧಿ – ಕ್ಷೀರ – ಘೃತ – ಸ್ವಾದೋದಕ
ಮೊದಲಾದ [ಸಪ್ತ] ಸಮುದ್ರಂಗಳಲ್ಲಿ
ಉದರಾಗ್ನಿ – ಮುಂದಾಗ್ನಿ – ಕಾಮಾಗ್ನಿ – ಶೋಕಾಗ್ನಿ –
ವಡವಾಗ್ನಿ – ಕಾಲಾಗ್ನಿ – ಚಿದಗ್ನಿ – [ಯೆಂಬ ಸಪ್ತಾಗ್ನಿ] ಇರ್ದು
ಆ ಸಮುದ್ರಂಗಳ ಸಂಸಾರ – ಪಾಶ – ಜನ್ಮ – ಜರೆ – ಮರಣಾದಿಗಳಿಗೆ
ಹೊರಗಾಗಿ ಇರ್ಪಂತೆ, ಶಿವಶರಣರ್ಗೆ ರೂಪಾಗಿ ಜಡಜೀವರಿಗೆ ನಿರೂಪವಾಗಿರ್ಪುದು
ನೋಡ ! ಗುಹೇಶ್ವರಲಿಂಗವು ಚೆನ್ನಬಸವಣ್ಣ. ॥ ೧೧೬ ॥

೮೧೧

ಅಯ್ಯ, ಸದಾಚಾರಸದ್ಭಕ್ತಿಯಿಲ್ಲದ ಗುರುತ್ವ ಉಂಟೇನೊ ಮರುಳೆ ?
ಸದಾಚಾರಸದ್ಭಕ್ತಿಯಿಲ್ಲದ ನಿಜಲಿಂಗ ಉಂಟೇನೊ ಮರುಳೆ ?
ಸದಾಚಾರಸದ್ಭಕ್ತಿಯಿಲ್ಲದ ನಿಜಜಂಗಮತ್ವ ಉಂಟೇನೊ ಮರುಳೆ ?
ಸದಾಚಾರಸದ್ಭಕ್ತಿಯಿಲ್ಲದ ಶರಣತ್ವ [ಉಂಟೇನೊ ಮರುಳೆ?]
ಗುಹೇಶ್ವರ ಲಿಂಗ[ದಲ್ಲಿ] ಸದಾಚಾರಸದ್ಭಕ್ತಿಯಿಂದಲ್ಲದೆ ನಿಜಮೋಕ್ಷವುಂಟೆ
ಚೆನ್ನಬಸವಣ್ಣಾ ? ॥ ೧೧೭ ॥

೮೧೨

ಅಯ್ಯ ಸದಾಚಾರಸದ್ಭಕ್ತಿಯಿಲ್ಲದ ಗುರುವು ನರಜೀವಿ.
ಆತನಿಂದ ಹುಟ್ಟಿದ ಲಿಂಗಾಂಗವೆರಡು ಜಡಜೀವಿ.
ಅವರಿಬ್ಬರಲ್ಲಿ ಹೊಕ್ಕು ಕೊಟ್ಟು ಕೊಂಬುವ ಜಂಗಮ ಭೂತಪ್ರಾಣಿ.
ಈ ನರಜೀವಿ, ಜಡಜೀವಿ, ಭೂತಪ್ರಾಣಿಗಳಿಗೆ ಕೊಟ್ಟುಕೊಂಬ ಭಕ್ತಂಗೆ
ಏಳನೆಯ ಪಾತಕ ಬಿಡದು ಕಾಣಾ.
ಗುಹೇಶ್ವರಲಿಂಗದ ಸದಾಚಾರಸದ್ಭಕ್ತಿಯಿಂದಲ್ಲದೆ ಮುಕ್ತಿಯಿಲ್ಲ ನೋಡಾ
ಚೆನ್ನಬಸವಣ್ಣ. ॥ ೧೧೮ ॥

೮೧೩

ಅಯ್ಯ ಸದಾಚಾರ ಸದ್ಭಕ್ತಿವಿಡಿದಾಚರಿಸಿದ ಗುರುವೆ ಪರಾತ್ಪರಬ್ರಹ್ಮನೋಡಾ.
ಆ ಗುರುವಿನಿಂದ ತ್ರಿವಿಧದೀಕ್ಷೆಯ ಪಡೆದ ಶಿಷ್ಯೋತ್ತಮನೆ ಮೋಕ್ಷಮಂದಿರನೋಡಾ.
ಆ ಶಿಷ್ಯೋತ್ತಮನ ಕರ – ಮನ – ಭಾವದಲ್ಲಿ ಪೂಜೆಗೊಂಬ
ಲಿಂಗ – ಜಂಗಮವೆ ನಿಷ್ಕಲ ಪರಶಿವತತ್ವನೋಡಾ.
ಆ ಗುರು – ಶಿಷ್ಯ – ಲಿಂಗ – ಜಂಗಮದಡಿದಾವರೆಯೆ ಗುಹೇಶ್ವರಲಿಂಗ ಸಾಕ್ಷಿಯಾಗಿ
ಎನಗೂ ನಿನಗೂ ಅವಿಮುಕ್ತ ಕ್ಷೇತ್ರ ನೋಡಾ ಚೆನ್ನಬಸವಣ್ಣ. ॥೧೧೯॥

೮೧೪

ಅಯ್ಯ ! ಸಪ್ತಧಾತುವಿನ ಸಪ್ತವ್ಯಸನವನಳಿದು,
ಜೀವನ ಸಂಕಲ್ಪ – ವಿಕಲ್ಪ ಆಸೆ – ಆಮಿಷಂಗಳ ಹೊಟ್ಟುಮಾಡಿ ತೂರಿ,
ಹಿಂದೆ ಹೇಳಿದ ಭಕ್ತಸ್ಥಲದಲ್ಲಿ ನಿಂದು ನಿರ್ವಂಚಕನಾಗಿ ಪಾತಕಸೂತಕಗಳ ಪರಿದು
ಸತ್ತುಚಿತ್ತಾನಂದ ನಿತ್ಯಪರಿಪೂರ್ಣ ಅವಿರಳಪರಂಜ್ಯೋತಿಮೂರ್ತಿಯಾಗಿ
ಪ್ರಜ್ವಲಿಸುವ ಸದ್ವೀರಮಾಹೇಶ್ವರನಂತರಂಗದಲ್ಲಿ
ಪರಮಾನಂದ ಲೀಲೆಯಿಂ ಇಪ್ಪತ್ತೈದು ತತ್ವಂಗಳನೊಳಕೊಂಡು
ಹದಿನೆಂಟು ಸ್ಥಲಂಗಳ ಗರ್ಭೀಕರಿಸಿಕೊಂಡು,
ಎರಡು ಸಾವಿರದ ಐನೂರ ತೊಂಬತ್ತೆರಡು ಮಂತ್ರಮಾಲೆಗಳ ಪಿಡಿದುಕೊಂಡು
ಇಪ್ಪತ್ತುನಾಲ್ಕು ಸಕೀಲಗರ್ಭದಿಂ, ಗುರುಮುಟ್ಟಿ ಗುರುವಾದ ಗುರುವಿಂಗೆ ಎಂಬ
ಎರಡೆಂಬತ್ತೆಂಟು ಕೋಟಿ ವಚನಾನುಭಾವವ ಸ್ವಾನುಭಾವಜ್ಞಾನದಿಂದರಿದು.
ಪುಷ್ಪ ಪರಿಮಳ [ಜ್ಯೋತಿ] ಪ್ರಕಾಶದಂತೆ ಏಕರೂಪಿನಿಂದ
ಮಂತ್ರಮೂರ್ತಿ ಗುರುಲಿಂಗವಾಗಿ [ನೆಲಸಿರ್ಪುದು] ನೋಡ
ನಿರವಯಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು ಚೆನ್ನಬಸವಣ್ಣ. ॥೧೨೦॥

೮೧೫

ಅಯ್ಯ ! ಸಮಸ್ತ ಆತ್ಮರು ರತಿಸಂಯೋಗದಿಂದ ಗರ್ಭಿಣಿಯಾದಲ್ಲಿ
ಹೆಣ್ಣು ಗಂಡೆಂಬ ನಾಮ – ರೂಪ – ಕ್ರಿಯೆಗಳು ಕಾಣಿಸಿಕೊಳ್ಳದಂತೆ;
ಬಾಲ ಶಿಶುವಿನೊಳಗೆ ಯೌವನವಡಗಿರ್ಪಂತೆ;
ಆ ಯೌವನದೊಳಗೆ ಮುಪ್ಪು ಅಡಗಿರ್ಪಂತೆ;
ಆ ಮುಪ್ಪಿನೊಳಗೆ ಜನನ-ಮರಣ – ಸ್ಥಿತಿ ಅಡಗಿರ್ಪಂತೆ:
ಆ ಜನನ ಮರಣ ಸ್ಥಿತಿಯೊಳಗೆ ಸಕಲ ಭೋಗಂಗಳಡಗಿರ್ಪಂತೆ;
ಸರ್ವಜೀವದಯಾಪರತ್ವವುಳ್ಳ ಸದ್ಭಕ್ತ ಶಿವಶರಣಗಣಂಗಳಲ್ಲಿ

ಮುಗಿಲ ಮರೆಯ ಸೂರ್ಯನಂತೆ ನೆಲದ ಮರೆಯ ನಿಧಾನದಂತೆ;
ಒರೆಯ ಮರೆಯ ಅಲಗಿನಂತೆ; ಹಣ್ಣಿನ ಮರೆಯ ರಸದಂತೆ
ಪರಮ ಪಾವನಮೂರ್ತಿ ನಿರವಯಘನವನೊಡಗೂಡಿ
ಏಕಸ್ವರೂಪಿನಿಂದ ಗುಹೇಶ್ವರಲಿಂಗವು
ತಾನು ತಾನಾಗಿರ್ದುದನೇನೆಂಬೆನಯ್ಯ ಚೆನ್ನಬಸವಣ್ಣ. ॥೧೨೫॥

೮೧೬

ಅಯ್ಯ ! ಸಮಸ್ತಧಾನ್ಯಾದಿಗಳಲ್ಲಿ, ಸಮಸ್ತ ಫಲಾದಿಗಳಲ್ಲಿ,
ಸಮಸ್ತಪುಷ್ಪಪತ್ರಾದಿಗಳಲ್ಲಿ
ಮಧುರ, ಒಗರು, ಕ್ಷಾರ, ಆಮ್ಲ, ಕಹಿ, ಲವಣ ಮೊದಲಾದ
ಸಮಸ್ತಪರಮಚಿದ್ರಸವಡಗಿರ್ಪಂತೆ,
ಷೋಡಶಮದಗಜದಂತರಂಗದ ಮಧ್ಯದಲ್ಲಿ
ಸಮಸ್ತ ವೈರಾಗ್ಯ, ತಿರಸ್ಕಾರಸ್ವರೂಪ ಮಹಾ [ಅ]ಜ್ಞಾನವಡಗಿರ್ಪಂತೆ,
ಚಂದ್ರಕಾಂತದ ಶಿಲಾಮಧ್ಯದಲ್ಲಿ ಚಿಜ್ಜಲವಡಗಿರ್ಪಂತೆ,
ಶಿಶುಗಳು 'ಕಂಡ ಕನಸು' ತಂದೆ ತಾಯಿಗಳಿಗೆ ಕಾಣಿಸಿದಂತೆ,
ಕರವೀರ, ಸುರಹೊನ್ನೆ, ಜಾಜಿ, ಬಕುಳ, ಪಾದರಿ, ಪಾರಿಜಾತ, ಮೊಲ್ಲೆ,
ಮಲ್ಲಿಗೆ, ತಾವರೆ, ನೈದಿಲೆ, ಸಂಪಿಗೆ, ದವನ, ಪಚ್ಚೆ, ಕಸ್ತೂರಿ,
ಮರುಗ, ಬಿಲ್ವ ಮೊದಲಾದ ಪುಷ್ಪ ಪತ್ರಾದಿಗಳಲ್ಲಿ
ಮಹಾಸದ್ವಾಸನಾ ಸ್ವರೂಪವಾದ ಪರಿಮಳವಡಗಿರ್ಪಂತೆ,
ಪ್ರಾಣ, ಅಪಾನ, ವ್ಯಾನ, ಉದಾನ, ಸಮಾನ,
ನಾಗ, ಕೂರ್ಮ, ಕೃಕರ, ದೇವದತ್ತ, ಧನಂಜಯವೆಂಬ ದಶವಾಯುಗಳ ಮಧ್ಯದಲ್ಲಿ
ಭ್ರಮರನಾದ, ವೀಣಾನಾದ, ಘಂಟಾನಾದ, ಭೇರಿನಾದ, ಮೇಘನಾದ,
ಪ್ರಣಮನಾದ, ದಿವ್ಯನಾದ, ಸಿಂಹನಾದ, ಶರಭನಾದ, ಮಹಾನಾದಂಗಳಡಗಿರ್ಪಂತೆ,
ಸದ್ಭಕ್ತ ಶಿವಶರಣಗಣಂಗಳ ಮಧ್ಯದಲ್ಲಿ ಅಡಗಿರ್ದು, ಜಗದ ಜಡಜೀವರಿಗೆ
ಗೋಚರವಿಲ್ಲದಿರ್ಪುದು ನೋಡ ! ಗುಹೇಶ್ವರಲಿಂಗವು, ಚೆನ್ನಬಸವಣ್ಣ ॥೧೨೬॥

೮೧೭

ಅಯ್ಯ ! ಸಮಸ್ತಲೋಕದ ಅಹಂ – ಮಮತೆಯೆಂಬ
ಮೂಲಾಹಂಕಾರಂಗಳ ಪಾವುಗೆಯ ಮಾಡಿ ಮೆಟ್ಟಿನಿಂದು
ಸರ್ವಾಂಗದಲ್ಲಿ ಚಿದ್ವಿಭೂತಿರುದ್ರಾಕ್ಷಿಮಂತ್ರ –
ಜ್ಞಾನ, ಕ್ರಿಯಾಪಾದೋದಕ ಪ್ರಸಾದಭಕ್ತಿಯೆ
ಅಂಗ ಮನ ಪ್ರಾಣ ಭಾವ ಇಂದ್ರಿಯಂಗಳಾಗಿ, ಹಿಂದೆ ಹೇಳಿದ

ಸದ್ಭಕ್ತ – ಮಹೇಶ್ವರ – ಪ್ರಸಾದಿ – ಪ್ರಾಣಲಿಂಗ – ಶರಣ – ಐಕ್ಯಸ್ಥಲಂಗಳ
ತನ್ನೊಳಗು ಮಾಡಿಕೊಂಡು
ಮೇಲಾದ ನಿರಾಲಂಬಸ್ಥಲದಲ್ಲಾ ಚರಿಸುವ ಶರಣನಂತರಂಗದಲ್ಲಿ
ಅಣುವಿಗೆ ಅಣುವಾಗಿ; ಮಹತ್ತಿಂಗೆ ಮಹತ್ತಾಗಿ
ನೂರೊಂದು ಸ್ಥಲಂಗಳ ಕರತಳಾಮಳಕವಾಗಿ
ಇಪ್ಪತ್ತೊಂದು ಸಾವಿರದಾ [ಆ]ರುನೂರು ಮಂತ್ರಮಾಲಿಕೆಗಳ ಪಿಡಿದುಕೊಂಡು
ಇನ್ನೂರ ಹದಿನಾರು ಸಕೀಲಗರ್ಭದಿಂ
ಪರಿಮಳ ಪರಿಮಳ ಕೂಡಿ ಭಿನ್ನದೋರದ ಹಾಂಗೆ ಏಕಸ್ವರೂಪಿನಿಂದೆ
ದೀಕ್ಷಾ – ಶಿಕ್ಷಾ – ಮೋಕ್ಷಕಾರಣಾವತಾರಮೂರ್ತಿ ನಿಃಕಳಲಿಂಗವಾಗಿ
ನೆಲಸಿಪ್ಪುದು ನೋಡ ! ನಿರವಯಶೂನ್ಯಲಿಂಗಮೂರ್ತಿ
ಗುಹೇಶ್ವರಲಿಂಗವು ಚೆನ್ನಬಸವಣ್ಣ. ॥೧೨೩॥

೮೧೮

ಅಯ್ಯ, ಸಾತ್ವಿಕ ಶರಣರ ನುಡಿ ಹುಸಿಯೆ ?
ಅದು ದಿಟ ಅದು ಆಟ.
ಒಳಗೆಂಬುದೆ ದೇವಲೋಕ, ಹೊರಗೆಂಬುದೆ ಮರ್ತ್ಯಲೋಕ.
ಈ ಎರಡು ಲೋಕಕ್ಕೆ ಹೊರಗಾಗಿ ನಾವಿರಲು
ಈ ಎರಡು ಲೋಕದೊಳಗೆಯೂ ತಾವೆ ಇರಲಿ ಗುಹೇಶ್ವರಾ. ॥೧೨೪॥

೮೧೯

ಅಯ್ಯ, ಸ್ಥೂಲದೇಹದ ಸುಖದಲ್ಲಿ ಹೊದ್ದಿದವರು ಸೂಕರನ ಹಾಂಗೆ.
ಸೂಕ್ಷ್ಮದೇಹದ [ಸುಖ]ದಲ್ಲಿ ಹೊದ್ದಿದವರು ಮದಗಜದಂತೆ.
ಕಾರಣ ದೇಹದ ಸುಖದಲ್ಲಿ ಹೊದ್ದಿದವರು ರಾಜಹಂಸನ ಹಾಂಗೆ.
ಅದೆಂತೆಂದಡೆ:
ಸ್ಥೂಲದೇಹವೆಂದಡೆ ಸಪ್ತಧಾತುಯುಕ್ತವಾದ ಪಂಚವಿಂಶತಿತತ್ವ ಸ್ವರೂಪು,
ಆ ದೇಹಕ್ಕೆ ಬಿಂದು ಮಾತ್ರ ಸುಖ ಪರ್ವತದಷ್ಟು ದುಃಖ ನೋಡಾ.
ಸೂಕ್ಷ್ಮದೇಹವೆಂದಡೆ: ಪಂಚರಸಾಮೃತಸ್ವರೂಪವಾದ ಕರಣಂಗಳು.
ಆ ದೇಹಕ್ಕೆ ಬಿಂದು ಮಾತ್ರ ದುಃಖವು, ಪರ್ವತದಷ್ಟು ಸುಖ ನೋಡಾ.
ದಶವಿಧತತ್ವಸ್ವರೂಪವಾದ ಕಾರಣದೇಹವೆಂದಡೆ:
ಅನಂತನಾದಸ್ವರೂಪವಾದ ಏಕತತ್ವವನ್ನುಳ್ಳ ಆತ್ಮನೆ ಕಾರಣದೇಹ,
[ಅದು] ದಿವ್ಯ ಸುಧಾರಸಾಮೃತಸ್ವರೂಪವಾದ ಮಹಾಸದ್ಗಂಧದ
ಪರಿಮಳದಂತಿಪ್ಪುದು ನೋಡಾ.

ಆ ದೇಹಕ್ಕೆ ಅಣುಮಾತ್ರ ದುಃಖವಿಲ್ಲದ ಸುಖವುಂಟು ನೋಡಾ,
ಲಿಂಗಸಂಗಿಯಾದ ಕಾರಣ.
ಇಂತಪ್ಪ ಲಿಂಗಸಂಗದಿಂದ ಅಖಂಡಸುಖಿ ತಾನಾಗಬೇಕಾದಡೆ
ಪಿಂಡಾದಿ ಜ್ಞಾನಶೂನ್ಯಾಂತಮಾದ ನೂರೊಂದು ಸ್ಥಳ–ಕುಳವ
ಕರತಳಾಮಳಕವಾಗಿ ತಿಳಿದು,
ಮೇಲಾದ ಜ್ಞಾನಶೂನ್ಯಸ್ಥಲದಲ್ಲಿ ನಿಂದು,
ಪಿಂಡಾದಿ ಜ್ಞಾನ ಗುರುಕರುಣ ಸ್ಥಲಂಗಳೆಂಬ ಮಾರ್ಗವು ತಪ್ಪದೆ
ನಡೆ–ನುಡಿ ಸಂಪನ್ನರಾಗಿ ನಿಜಾಚರಣೆಯಲ್ಲಿ ನಿಂದು
ಅರು ವೈರಿ ಅಷ್ಟಮದ [ಸಪ್ತ]ವ್ಯಸನವೆಂಬ ಮಾಯಾಪಾಶಪರ್ವತಕ್ಕೆ
ವಜ್ರಾಯುಧವಾಗಿ ನಿಂದರು ನೋಡಾ ನಮ್ಮ ಶರಣಗಣಂಗಳು.
ಇಂತು–ಕಾರಣಸ್ವರೂಪವಾದ
ಚಿದ್ಘನಲಿಂಗ ನಡೆ–ನುಡಿ–ಸ್ಥಳ–ಕುಳದನುಭಾವ ಸುಖವ ಪಡೆಯದ
ಶೈವ ಜಡಕರ್ಮಿಗಳೆಲ್ಲ,
ಅರುವೈರಿ ಅಷ್ಟಮದ ಸಪ್ತವ್ಯಸನವೆಂಬ
ಮಾಯಾಪಾಶ ಕಾಲ ಕಾಮರ ಬಾಧೆಗೊಳಗಾಗಿ
ಗುಹೇಶ್ವರಲಿಂಗದ ಶರಣರ ಮಾರ್ಗವನರಿಯದೆ [ಕೆಟ್ಟರು].
ಕೆಟ್ಟಿತೀ ಲೋಕ ನೋಡಾ ಸಿದ್ಧರಾಮಯ್ಯಾ. ॥೧೨೫॥

೮೨೦

ಅರಸಿ ಅರಸಿ ಹಾ ಹಾ ಎನುತ್ತಿದ್ದೆನು.
ಬೆದಕಿ ಬೆದಕಿ ಬೆದಬೆದ ಬೇವುತ್ತಿದ್ದೆನು
ಗುಹೇಶ್ವರಾ ಕಣ್ಣ ಮೊದಲಲ್ಲಿದ್ದವನ ಕಾಣೆನು. ॥೧೨೬॥

೮೨೧

ಅರಸುವ ಬಳ್ಳಿ ಕಾಲ ಸುತ್ತಿತ್ತೆಂಬಂತೆ.
ಬಯಸುವ ಬಯಕೆ ಕೈಸಾರಿದಂತೆ.
ಬಡವ ನಿಧಾನವನೆಡಹಿ ಕಂಡಂತೆ.
ನಾನರಸುತ್ತಲರಸುತ್ತ ಬಂದು
ಭಾವಕ್ಕಗಮ್ಯವಾದ ಮೂರ್ತಿಯ ಕಂಡೆ ನೋಡಾ.
ಎನ್ನ ಅರಿವಿನ ಹರುಹ ಕಂಡೆ ನೋಡಾ.
ಎನ್ನ ಒಳಹೊರಗೆ ಎಡೆದೆರಹಿಲ್ಲದೆ ಥಳಥಳಿಸಿ ಬೆಳಗಿ ಹೊಳೆವುತಿಪ್ಪ
ಅಖಂಡಜ್ಯೋತಿಯ ಕಂಡೆ ನೋಡಾ !
ಕರುಹಳಿದ ಕರಸ್ಥಲದ ನಿಬ್ಬೆರಗಿನ ನೋಟದ
ಎನ್ನ ಪರಮಗುರುವ ಕಂಡು ಬದುಕಿದೆನು ಕಾಣಾ ಗುಹೇಶ್ವರಾ ॥೧೨೭॥

೮೨೨

ಅರಿತು ಜನ್ಮವಾದವರಿಲ್ಲ, ಸತ್ತು ಮರಳಿ ತೋರುವರಿಲ್ಲ.
ದುರಭಿಮಾನವ ಹೊತ್ತು ಅಘಟಿತ ಘಟಿತವ ನುಡಿವಿರಿ.
ಈ ದೇಹವಿಡಿದು ನುಡಿವ ಪ್ರಪಂಚಿಗಳನೇನೆಂಬೆ ಗುಹೇಶ್ವರಾ. ॥೧೨೮॥

೮೨೩

ಅರಿದಡೆ ಸುಖವಿಲ್ಲ; ಮರದಡೆ ದುಃಖವಿಲ್ಲ ! ಸತ್ತಡೆ ಚೇಗೆಯಿಲ್ಲ;
ಬದುಕಿದಡೆ ಆಗಿಲ್ಲವೆಂಬ ! ನಿರ್ಣಯದಲ್ಲಿ ನಿಶ್ಚಯಿಸಿ ನಿಲ್ಲದೆ !
ನಾನು ನೀನೆಂಬ ಉಭಯವಳಿದು ಕೂಡುವ ಯೋಗದ ಹೊಲಬನರಿಯದೆ !
ಬರಿಯ ಮರವೆಯ ಪ್ರೌಢಿಕೆಯಲ್ಲಿ ಕೆಟ್ಟರಯ್ಯ ಗುಹೇಶ್ವರ. ॥೧೨೯॥

೮೨೪

ಅರಿದರಿದು ನಿಮ್ಮ ನೆನೆವ ಪರಿಕರ ಹೊಸತು
ಅಲಗನೇರಿ ಹೂವ ಕೊಯ್ದು ಇಳಿದು ಬರುವಂತೆ,
ಗುಹೇಶ್ವರಾ ನಿಮ್ಮ ಶರಣ ಚನ್ನಬಸವಣ್ಣಂಗಲ್ಲದೆ. ॥೧೩೦॥

೮೨೫

ಅರಿದ ಶರಣಂಗೆ ಆಚಾರವಿಲ್ಲ, ಆಚಾರವುಳ್ಳವಂಗೆ ಲಿಂಗವಿಲ್ಲ;
ಲಿಂಗವಿಲ್ಲದ ಶರಣನ ಸುಳುಹು ಜಗಕ್ಕೆ ವಿಪರೀತ,
ಚರಿತ್ರವದು ಪ್ರಕಟವಲ್ಲ ನೋಡಾ !
ಸಂಸಾರಿ ಬಳಸುವ ಬಯಕೆಯನೆಂದೂ ಹೊದ್ದನು.
ಸಟೆಯ ಹಿಡಿದು ದಿಟವ ಮರೆದು,
ಇಲ್ಲದ ಲಿಂಗವನು ಉಂಟೆಂದು ಪೂಜಿಸುವರಾಗಿ ಆಚಾರವುಂಟು,
ಆಚಾರವುಳ್ಳವಂಗೆ ಗುರುವುಂಟು. ಗುರುವುಳ್ಳವಂಗೆ ಲಿಂಗವುಂಟು,
ಲಿಂಗಪೂಜಕಂಗೆ ಭೋಗವುಂಟು.
ಈ ಬರಿಯ ಬಾಯ ಬಣ್ಣಕರೆಲ್ಲರೂ ಪೂಜಕರಾದರು.
ಗುಹೇಶ್ವರಲಿಂಗವು ಅಲ್ಲಿ ಇಲ್ಲವೆಂಬುದನು;
ಈ ವೇಷಲಾಂಛನರೆತ್ತಬಲ್ಲರು ಹೇಳಾ ಸಂಗನಬಸವಣ್ಣ. ॥೧೩೧॥

೮೨೬

ಅರಿದು ಮರೆದು ಬೆರಗು ಹತ್ತಿತ್ತು.
ಏನೆಂದರಿಯದೆ ಅದೆಂತೆಂದರಿಯದೆ
ಗುಹೇಶ್ವರಾ ಗುಹೇಶ್ವರಾ ಎನುತ ಅಲ್ಲಿಯೆ ನಿಂದಿತ್ತು. ॥ ೧೩೨ ॥

೮೨೭

ಅರಿಯದ ಕಾರಣ ಕುರುಹುವಿಡಿವೆನಲ್ಲದೆ
ಅರಿದ ಬಳಿಕ ಇನ್ನೇನೊ ?
ಬಿಟ್ಟಡೆ ಸಮಯವಿರೋಧ, ಬಿಡದಿದ್ದರೆ ಜ್ಞಾನವಿರೋಧ.
ಗುಹೇಶ್ವರಲಿಂಗವು ಉಭಯ ದಳದ ಮೇಲೈದಾನೆ ಕಾಣಾ
ಸಿದ್ಧರಾಮಯ್ಯಾ. ॥೧೩೩॥

೮೨೮

ಅರಿಯದೆ [ಅರಿದು?] ಅರಸಿದಡೆ ಮನದ ವಿಕಾರ,
ಸುಳಿದರಸಿದಡೆ ಪವನವಿಕಾರ, ನಿಂದರಸಿದಡೆ ದೇಹವಿಕಾರ,
ಒಳಗನರಸಿದಡೆ ಜ್ಞಾನವಿಕಾರ.
ಅರಸದೆ ಬೆರಸಿದಡೆ ಆತನೆ ಶರಣ ಗುಹೇಶ್ವರಾ. ॥೧೩೪॥

೮೨೯

ಅರಿವ ಆತ್ಮ;
ಕಂಗಳ ಮರೆಯಲ್ಲಿ ಕಾಂಬಂತೆ,
ಕಿವಿಯ ಮರೆಯಲ್ಲಿ ಕೇಳುವಂತೆ–
ಕಂಗಳು ನಷ್ಟವಾದಲ್ಲಿ ಕರ್ಣ ಬಧಿರವಾದಲ್ಲಿ
ಕಾಂಬುದು ಕೇಳುವುದು ಅಲ್ಲಿಯೆ ನಿಂದಿತ್ತು.
ಆತ್ಮನ ಅರಿವಾವುದು ? ಗುಹೇಶ್ವರನೆಂಬ ಕುರುಹಾವುದು;
ಅಂಬಿಗರ ಚೌಡಯ್ಯ ? ॥೧೩೫॥

೮೩೦

ಅರಿವನರಿದಹೆನೆಂಬುದು ಮರವೆ,
ಮರಹ ಮರೆದಹೆನೆಂಬುದು ಮರವೆ,
ಸಾಕಾರ ನಷ್ಟ ನಿರಾಕಾರ ದೃಷ್ಟವೆಂಬುದು ಭಾವದ ಬಳಲಿಕೆ.
ಗುರುವೆಂಬುದು ಶಿಷ್ಯನೆಂದಲ್ಲಿಯೆ ಹೋಯಿತ್ತು.
ಶಿಷ್ಯನೆಂಬುದು ಗುರುವೆಂದಲ್ಲಿಯೆ ಹೋಯಿತ್ತು.
ನಿರ್ಣಯದಲ್ಲಿ ನಿಜೈಕ್ಯನಾದಹೆನೆಂದಡೆ, ಎಚ್ಚರಿಕೆಯಲ್ಲಿ ತಪ್ಪಿತ್ತು.
ಸಹಜ ಸಂಬಂಧಕ್ಕೆ ಗುರುವಲ್ಲದೆ ಅಸಹಜಕ್ಕೆ ಗುರುವುಂಟೆ ?
ಗುಹೇಶ್ವರಲಿಂಗದಲ್ಲಿ ಪರವೆಂದಲ್ಲಿ ಗುರುವುಂಟಲ್ಲದೆ
ಸ್ವಯವೆಂದಲ್ಲಿ ನುಡಿಯಲಿಲ್ಲ. ॥೧೩೬॥

೮೩೧

ಅರಿವನರಿದು ಮರಹ ಮರೆದು,
ಸಂಕಲ್ಪ ಸಂಶಯವಳಿದ ನಿಲವನು, ಅರಿದ ಪರಿ ಎಂತು ಹೇಳಾ ?
ಅರಿದೆನೆಂದಡೆ ಜ್ಞಾನಕ್ಕೆ ದೂರ, ಮರೆದೆನೆಂದಡೆ ಮನಕ್ಕೆ ದೂರ.
ನಿರ್ಭಾವದ ಹೊಲಿಗೆಯಲ್ಲಿ ಭಾವಸಂಕಲ್ಪ ಬಿಡದು.
ನಮ್ಮ ಗುಹೇಶ್ವರಲಿಂಗದಲ್ಲಿ ಮನಮಗ್ನಯೋಗ,
ನಿನಗೆಂತು ಸಾಧ್ಯವಾಯಿತ್ತು ಹೇಳಾ ಸಿದ್ಧರಾಮಯ್ಯಾ ? ॥೧೩೭॥

೮೩೨

ಅರಿವ ಬಲ್ಲೆನೆಂದು ಬರುನುಡಿಯ ನುಡಿವರೆ ?
ಸತ್ಯವನರಿದವಂಗೆ ಮಿಥ್ಯಾಭಾವವುಂಟೆ ?
ತಥ್ಯ ಮಿಥ್ಯ ಉಭಯಭಾವವಳಿದಿರಬೇಕು.
ಸಮಯವೆಂಬುದು ಸಂಪದ. ಅದು ನಿನಗನ್ಯವೆ ?
ಸರ್ವಮಯ ಸಂಪದವಾದಲ್ಲಿ
ಗುಹೇಶ್ವರಲಿಂಗಕ್ಕೆ ತಥ್ಯಮಿಥ್ಯವಿಲ್ಲ ಘಟ್ಟಿವಾಳಯ್ಯ. ॥೧೩೮॥

೮೩೩

ಅರಿವರತು ಬೆರಗುಹೊಡೆದು, ಕುರುಹುಗೆಟ್ಟವನ,
ಬಂದ ಬಟ್ಟೆಯಲ್ಲಿ ಬಾರದೆ ಹೋದವನ,
ಕಂಗಳಲುಂಡವನ, ಮನದಲ್ಲಿ ದಣಿದವನ,
ಕಿಚ್ಚಿಲ್ಲದೆ ಬೆಂದವನ, ಅಚ್ಚಲಿಂಗೈಕ್ಯನ,
ಕೈಯಿಲ್ಲದೆ ಕೊಂಡವನ, ಬಾಯಿಲ್ಲದೆ ಉಂಡವನ,
ಒಡಲಿಲ್ಲದೆ ಅವಗ್ರಹಿಸಿದವನ – ನಂಬು ಗುಹೇಶ್ವರಲ್ಲಮನ ! ॥೧೩೯॥

೮೩೪

ಅರಿವರತು ಮರಹುಗೆಟ್ಟು ತನ್ನಲ್ಲಿ ತಾನು ಸನ್ನಹಿತನಾದವಂಗೆ
ದುಃಖಿಸುವರೆ ಹೇಳಾ ? ಶೋಕಿಸುವರೆ ಹೇಳಾ ?
ಒಡಲಿಲ್ಲದಾತಂಗೆ ಎಡೆಯಲೊಂದು ಅಳಿವುಂಟೆಂದು
ನುಡಿದು ಹೇಳುವ ಮಾತು ಭ್ರಾಂತು ನೋಡಾ !
ಎರಡಿಲ್ಲದ ಐಕ್ಯಂಗೆ ಒಳಹೊರಗಿಲ್ಲ ನೋಡಾ,
ಗುಹೇಶ್ವರನ ಶರಣ ಅಜಗಣ್ಣಂಗೆ ! ॥೧೪೦॥

೮೩೫

ಅರಿವಿಂಗಸಾಧ್ಯ, ಉಪಮೆಗೆ ಕಡೆ ಮುಟ್ಟದು !
ಗುಹೇಶ್ವರನ ಕರುಣಪ್ರಸಾದಿ ಮರುಳುಶಂಕರದೇವ
ಎಂತಿಪ್ಪನೆಂಬುದ ತಿಳಿದು ನೋಡಾ, ಸಂಗನಬಸವಣ್ಣ. ॥೧೪೧॥

೮೩೬

ಅರಿವಿಂದರಿಯಬಾರದು, ಕುರುಹುವಿಡಿದ ಪರಿಯೆಂತಯ್ಯಾ ?
ತೆರಹಿಲ್ಲದ ಘನವನರಿದೆಹೆನೆಂದಡೆ, ಅರಹು ಮರಹು ನಷ್ಟವಾದ
ಮಹದರಿವು ತಾನಾಗಿ ಗುಹೇಶ್ವರಲಿಂಗವನರಿಯದಂತಿರಬೇಕು
ಕಾಣಾ ಸಿದ್ಧರಾಮಯ್ಯ. ॥೧೪೨॥

೮೩೭

ಅರಿವಿನ ನಿರಿಗೆಗಾಣದೆ ಗಿರಿಯ ಕೋಡುಗಲ್ಲ ಮೇಲೆ
ತಲೆಯೂರಿ ತಪಸ್ಸು ಮಾಡಿದಡಿಲ್ಲ, ಇಲ್ಲದ ಕಾಲಕ್ಕಿಲ್ಲ,
ಗಾತ್ರವ ದಂಡಿಸಿದಡಿಲ್ಲ ಪೃಥ್ವಿಯ ತಿರುಗಿದಡಿಲ್ಲ,
ತೀರ್ಥಂಗಳ ಮಿಂದು ನಿತ್ಯನೇಮಂಗಳ ಮಾಡಿ
ಜಪಸಮಾಧಿಯಲ್ಲಿ ನಿಂದಡಿಲ್ಲ,
"ಪೂಜಾಕೋಟಿಸಮಂ ಸ್ತೋತ್ರಂ, ಸ್ತೋತ್ರಕೋಟಿಸಮಂ ಜಪಃ
ಜಪಕೋಟಿ ಸಮಂ ಧ್ಯಾನಂ, ಧ್ಯಾನಕೋಟಿರ್ಮನೋ ಲಯಃ –
ಎಂದುದಾಗಿ,
ಸುತ್ತಿಸುಳಿವ ಮನವ ಚಿತ್ತಿನಲ್ಲಿರಿಸಿ, ಚಿತ್ತು ಲಯವಾದಡೆ ನಿತ್ಯಪ್ರಕಾಶ !
ಗುಹೇಶ್ವರಲಿಂಗವ ಮತ್ತೆ ಅರಸಲುಂಟೆ ? ॥೧೪೩॥

೮೩೮

ಅರಿವಿನ ಹೃದಯ ಕಂದೆರೆಯಬೇಕೆಂದು
ಗುರುವೆಂದು ಕಲ್ಪಿಸಿಕೊಂಬರಲ್ಲದೆ,
ಗುರುವೆಂದೆನಲುಂಟೆ ಶಿಷ್ಯಂಗೆ ?
ಶಿಷ್ಯನೆಂದೆನಲುಂಟೆ ಗುರುವಿಂಗೆ ?
ಗಮನಾಗಮನ ನಾಸ್ತಿಯಾದ ಲಿಂಗಕ್ಕೆ
ಅಂಗವೆಲ್ಲಿಯದು ಹೇಳಾ ಗುಹೇಶ್ವರಾ ? ॥೧೪೪॥

೮೩೯

ಅರಿವಿನೊಳಗಣ ಮರಹು, ಮರಹಿನೊಳಗಣ ಅರಿವು !
ಅರಿದು ಮರೆದು ನೆನೆದಡೆ ನೆಲೆಗೊಳ್ಳದು.

ಅರಿವರಾರಯ್ಯ ಆಗಮ್ಯಲಿಂಗವನು ?
ಕೊಟ್ಟು ಕೊಂಡಾಡುವ ವ್ಯವಹಾರಕ್ಕೆಲ್ಲಿಯದೊ ?
ನೀರಲೊದಗಿದ ಬೆಣ್ಣೆ ಮುಗಿಲಲೊದಗಿದ ಕಿಚ್ಚು
ಪವನನ ಶಬ್ದ ಸಂಚಕ್ಕೆ ಬಣ್ಣವುಂಟೆ ?
ಗುಹೇಶ್ವರಲಿಂಗದ ನಿಲವ ತೋರಬಾರದು – ಕೇಳಾ ಸಂಗನಬಸವಣ್ಣಾ. ||೧೪೫||

೮೪೦

ಅರಿವು ಉದಯವಾದಲ್ಲದೆ ಮರಹು ನಷ್ಟವಾಗದು.
ಮರಹು ನಷ್ಟವಾದಲ್ಲದೆ ಅರಿವು ಸಯವಾಗದು.
ಅರಿವು ಸಯವಾಗಿ ದೊರೆಕೊಂಡ ಬಳಿಕ; –
ಗುರುವಾರು ? ಲಿಂಗವಾರು ? ಆವುದು ಘನ, ಆವುದು ಕಿರಿದು ಹೇಳಾ ?
ಗುಹೇಶ್ವರಲಿಂಗದಲ್ಲಿ ಅರಿದು ಮರೆದು ಉಪದೇಶವ ಹಡೆದಡೆ
ಮುಂದೆ ನಿಜವೆಂತು ಸಾಧ್ಯವಪ್ಪುದು,
ಹೇಳಾ ಮಡಿವಾಳ ಮಾಚಯ್ಯಾ ? ||೧೪೬||

೮೪೧

ಅರಿವುಗೆಟ್ಟು ಮರ[ಕುರು ?]ಹಳಿದು
ಭಾವಭ್ರಾಂತು ನಿಭ್ರಾಂತವಾದವರ ಕೈಯಲ್ಲಿ
ಕರುಹನರಸುವರೆ ಹೇಳಾ ?
ತಾನಳಿದು ತಾನುಳಿದು ತಾನುತಾನಾದ ನಿಜಶರಣಂಗೆ
ಅಂತರಂಗದಲ್ಲಿ ಒಂದು ಅರಿವುಂಟೆ ?
ಗುಹೇಶ್ವರನ ಶರಣರ ನಿಲವು
ಕಾಯಗೊಂಡವರ ಕಣ್ಣಿಂಗೆ ಸಂದೇಹವಾಗಿಪ್ಪುದು.
ನಿಸ್ಸಂದೇಹಿಗಳಿಗೆ ನಿಜವಾಗಿಪ್ಪುದು ನೋಡಾ ಮರುಳೆ. ||೧೪೭||

೮೪೨

ಅರಿವು ಮರವೆಯನರಿದು ನೆರೆನಿಂದ ನಿಜವನಾರು ಬಲ್ಲರೊ ?
ಭಾವ ನಿರ್ಭಾವವ ಮೀರಿದ ಮಹಾಘನವ ಭಾವಿಸುವರಿನ್ನಾರೊ ?
ಅದು ಭಾವಕ್ಕತೀತವಾಗಿ ಭಾವಿಸಲಿಲ್ಲ. ಮನಕ್ಕೆ [ಅ]ಗೋಚರವಾಗಿ ನೆನೆಯಲಿಲ್ಲ.
ಅರಿವುದಕ್ಕೆ ಕುರುಹಿಲ್ಲ, ಮರೆವುದಕ್ಕೆ ತೆರಹಿಲ್ಲ.

ಜ್ಞಾತೃ, ಜ್ಞಾನ, ಜ್ಞೇಯವಳಿದು ನಿಃಪತಿ,
ಗುಹೇಶ್ವರಾ ನಿಮ್ಮ ಶರಣ, ನಿಶ್ಚಿಂತನಿವಾಸಿಯಾದನು. ||೧೪೮||

೪೪೩

ಅರೂಪು ಕಾಣಬಾರದು, ಪೂಜಿಸುವ ಪರಿ ಇನ್ನೆಂತೊ ?
ರೂಪಿಂಗೆ ಕೇಡುಂಟು ಪೂಜಿಸುವ ಪರಿ ಇನ್ನೆಂತೊ ?
ಸಕಲ ನಿಷ್ಕಲ ಪೂಜೆಗೆ ಕಾರಣವಲ್ಲ !
ಇನ್ನೆಂತಯ್ಯಾ ಲಿಂಗವಂತರಿಗೆ ಪೂಜಿಸುವ ಪರಿ ?
ಲಿಂಗದ ಪರಿ ಇನ್ನೆಂತಯ್ಯಾ ?
ಅರಿಯಬಾರದ ಲಿಂಗವನು ಅರಿವಂತೆ ಮಾಡಿಕೊಟ್ಟನು ಶ್ರೀಗುರು.
ಈ ಎರಡುವನರಿದು ಪೂಜಿಸಬೇಕು ಗುಹೇಶ್ವರಾ. ||೧೪೯||

೪೪೪

ಅರ್ಚನೆ ಪೂಜನೆಯ ನಿಮಗೆ ನಾನು ಹಂಗು ಹರಿಯಿಲ್ಲದೆ ಮಾಡುವೆನಯ್ಯಾ
ನಾ ಮಾಡುವ ಕ್ರೀಯೆಲ್ಲವು ನೀವೆಯಾದ ಕಾರಣ,
ನಿಮ್ಮಲ್ಲಿ ತದ್ಗತನಾಗಿದ್ದೆ ಕಾಣಾ ಗುಹೇಶ್ವರಾ. ||೧೫೦||

೪೪೫

ಅರ್ಧನಾರೀಶ್ವರನೆಂಬರು ಅನುವನರಿಯದವರು.
ತ್ರಿಪುರವಿಜಯನೆಂಬರು ವಿರೋಧಿಗಳಾದವರು.
ಕಾಮಾರಿಯೆಂಬರು ಕಣ್‌ಕಾಣದವರು.
ಜಟಾಜೂಟಕೋಟೀರಭಾರನೆಂಬರು ಜಾಣರಲ್ಲದವರು.
ನಮ್ಮ ಗುಹೇಶ್ವರಲಿಂಗ ಇಂತಹ ಬಹುರೂಪದವನಲ್ಲ ! ||೧೫೧||

೪೪೬

ಅರ್ಪಿತ ಅನರ್ಪಿತವನಾರುಬಲ್ಲರಯ್ಯಾ ?
ಅರ್ಪಿಸಿ ಕೊಂಬುದು ಅನರ್ಪಿತ
ಅರ್ಪಿಸದೆ ಕೊಂಬುದೂ ಮುನ್ನವೆ ಅನರ್ಪಿತ.
ಅರ್ಪಿಸಿ ಅರ್ಪಿಸದೆ ಕೊಳಬಲ್ಲ
ಗುಹೇಶ್ವರಾ ನಿಮ್ಮ ಶರಣ. ||೧೫೨||

೮೪೭

ಅವಧಿ ಅಳಿಯಿತ್ತು ವ್ಯವಧಾನ ಉಳಿಯಿತ್ತು.
ನಿಜವೆ ನಿಜವನೊಡಗೂಡಿತ್ತು ಕೇಳಾ ಬಸವಣ್ಣ.
ಕಲಿಯುಗದಲ್ಲಿ ಮುಂದೆ ಇರಬಾರದು ನಿಜ ಶರಣಂಗೆ
ನಡೆ ನೀನು ಕಪ್ಪಡಿಯ ಸಂಗಯ್ಯನಲ್ಲಿ ಒಡಗೂಡು.
ಉಳುಮೆಯಲ್ಲಿ ನಿಜವನೆಯ್ದು ನಡೆ, ಚೆನ್ನಬಸವಣ್ಣಾ.
ಮಹವನೊಡಗೂಡು ಮಡಿವಾಳಯ್ಯ.
ಸೊಡ್ಡಳ ಬಾಚರಸರು ಮೊದಲಾದ ಪ್ರಮಥರೆಲ್ಲರು
ನಿಜವನೆಯ್ದುವುದು ನಿರ್ವಯಲ ಸಮಾಧಿಯಲ್ಲಿ.
ಬಗಿದು ಹೋಗಿ ಲಿಂಗದೊಳಗೆ ಹೊಗುವರೆಲ್ಲರೂ !
ನಡೆಯಿರಿ ಕಾಯವೆರಸಿ ಕೈಲಾಸಕ್ಕೆ, ಕಾಯಸಹಿತ ಎಯ್ದುವುದು.
ನಿಮಗೆಲ್ಲರಿಗೆಯೂ ಉಪದೇಶಮಂತ್ರ ತಪ್ಪದು.
ನಮಗೆ ಕದಳಿಯಲ್ಲಿ ಹೊಕ್ಕು ನಿಜದಲ್ಲಿ ಒಡಗೂಡುವ ಪರಿಣಾಮ.
ಇದು ನಮ್ಮ ಗುಹೇಶ್ವರಲಿಂಗದ ಅಣತಿ ನಿಮಗೆಲ್ಲರಿಗೆಯೂ. ॥೧೫೩॥

೮೪೮

ಅವನು ಜಗವ ನುಂಗಿ, ಜಗವವನ ನುಂಗಿ,
ಸೀಮೆಯ ನಿಸ್ಸೀಮೆ ನುಂಗಿ,
ಗುಹೇಶ್ವರನೆಂಬ ನಾಮವ ಲಿಂಗವು ನುಂಗಿತ್ತು. ॥೧೫೪॥

೮೪೯

ಅವಸ್ಥಾತ್ರಯಮಂ ಬಿಟ್ಟು ಇಷ್ಟಲಿಂಗದ ಗರ್ಭದಲ್ಲಿ
ಕಾಯವ ನಿಕ್ಷೇಪವಂ ಮಾಡಿದ ಬಳಿಕ ಕಾಲನ ಭಯವಿಲ್ಲ.
ನೇತ್ರದಲ್ಲಿರ್ದ ಪ್ರಾಣಲಿಂಗದ ಮೇಲೆ ಮನವ ನಿಲಿಸಿದ ಬಳಿಕ ಕಾಮನ ಭಯವಿಲ್ಲ.
ಏಕಾಂತ ಸ್ಥಾನವಾಗಿ, ಅಂತರಂಗದ ಭಾವ
ಜ್ಯೋತಿರ್ಲಿಂಗದಲ್ಲಿ ಅರಿವು ಸಂಧಾನದಿಂ ಸಮರಸವಾಗಲು, ಕರ್ಮದ ಭಯವಿಲ್ಲ.
ಈ ತ್ರಿಲಿಂಗ ಸಂಬಂಧದಿಂದ ಕಾಲಕಾಮಕರ್ಮವನೊತ್ತಿ ಮೆಟ್ಟಿ ನಿಲ್ಲದೆ,
ವಿಷಯಸುಖಕ್ಕೆ ಮೆಚ್ಚಿ ಆ ಮೂವರ ಕಾಲ ಕೆಳಗೆ ಬಿದ್ದು,
ಮಹಾದುಃಖಕ್ಕೊಳಗಾದರು, ನರರು.
ಈ ವಿಷಯಗಾಳಿ ಸೋಂಕಲು ಹರಿ ಹತ್ತು ಭವವೆತ್ತಿದ.
ಅಜ ೨೧ ಭವವೆತ್ತಿ ಶಿರ ಕಳಕೊಂಡ.

ಇಂದ್ರನ ಮೈ ಕೆಟ್ಟಿತ್ತು, ಚಂದ್ರ ಕ್ಷಯ ರೋಗಿಯಾದ.
ದಿವಸೇಂದ್ರ ಕಿರಣ ನಷ್ಟವಾದ.
ಮುನೀಂದ್ರರ್ನಷ್ಟವಾಗಿ ಮಡಿದರು.
ಮನು ಮಾಂಧಾತರು ಮಂದಮತಿಗಳಾದರು.
ದೇವ ದಾನವ ಮಾನವರು ಮಡಿದರು.
ಇದ ನೋಡಿ ನಮ್ಮ ಶರಣರು,
ವಿಷಯಗಾಳಿ ತಮ್ಮ ಸೋಕೀತೆಂದು ಶಾಂಭವಪುರದಲ್ಲಿಯೆ ನಿಂದು,
ನಿರ್ವಿಷಯಾಸ್ತ್ರದಲ್ಲಿ ವಿಷಯಗಾಳಿಯ ಛೇದಿಸಿ ಜಯಿಸಿ
ಅಕ್ಷಯ ಸುಖಿಗಳಾದರು ನೋಡಾ ಗುಹೇಶ್ವರಲಿಂಗದಲ್ಲಿ. ॥೧೫೫॥

೮೫೦

ಅವಸ್ಥೆ ಅವಸ್ಥೆಯ ಕೂಡಿ, ಬಿಂದು ನಾದವ ಕೂಡಿ,
ಕಳೆಕಳೆಗಳು ಒಂದಾದ ಪರಿಯ ನೋಡಾ !
ಅದು ಲಿಂಗದಲನಿಮಿಷ, ಆನೆಂಬ ಗುರುಪದವಾದೆನಯ್ಯಾ.
ಹಿಂದು ಮುಂದ ಒಂದು ಮಾಡಿ ಮೂರ್ತಿಯಾಗಿ
ಲಿಂಗ ಜಂಗಮವಾದ ಪರಿಯ ನೋಡಾ !
ಗುಹೇಶ್ವರನ ಅಮಳೋಕ್ಯವಾದ ಸಂಗನಬಸವಣ್ಣನ
ಶ್ರೀಪಾದಕ್ಕೆ ನಮೋ ನಮೋ ಎಂಬೆನು. ॥೧೫೬॥

೮೫೧

ಅಶನಕ್ಕಂಜಿ ವೇಷವನೆ ಹೊತ್ತು ದೇಶವ ತೊಳಲುವ
ಹಿರಿಯರ ಗಂಡ, ಕಾಲನ ಗಂಡ ಕರ್ಮದ ಗಂಡ
ಲಿಂಗವಿಡಿದು ಸಾವ ಹಿರಿಯರ ಗಂಡ
ಗುಹೇಶ್ವರಾ ನಿಮ್ಮ ಶರಣ ಘಟ್ಟಿವಾಳ
ಅಲ್ಲಮನಂತಿತೆಂಬವರ ಗಂಡ. ॥೧೫೭॥

೮೫೨

ಅಷ್ಟವಿಧಾರ್ಚನೆ ಷೋಡಶೋಪಚಾರಂಗಳ
ಹಂಗು ಹರಿಯಿಲ್ಲದೆ ಮಾಡುವೆನು.
ನಾ ಮಾಡುವ ಕ್ರೀಗಳೆಲ್ಲವು ನೀವೆಯಾದ ಕಾರಣ
ಗುಹೇಶ್ವರಾ ನಿಮ್ಮಲ್ಲಿ ತದ್ಗತವಾಗಿದ್ದೆನು. ॥೧೫೮॥

೮೫೩

ಅಹುದಹುದು ಕಿಂಕುರ್ವಾಣ ! ಮಝ್ಝು ಭಾಪು !
ಬಲ್ಲವರು ಬಲ್ಲೆವೆಂದೆಂಬರೆ ?
ಲಿಂಗವಂತರ ಮಹಿಮೆ ಈ ಹೀಂಗಿರಬೇಡಾ ?
ಗುಹೇಶ್ವರನ ಅಪ್ಯಾಯನವಡಗಿಸುವ ಅನುವನು
ನೀನಲ್ಲದೆ ಮಹೀತಳದೊಳು ಮತ್ತೆ ಬಲ್ಲವರಾರು ?
ಹೇಳಾ ಸಂಗನಬಸವಣ್ಣಾ. ॥೧೫೯॥

೮೫೪

ಅಹುದಹುದು ಬಸವಣ್ಣಾ ನೀನೆಂದುದನಲ್ಲೆನಬಹುದೆ ?
ಎನ್ನ ಮನದ ಕಪ್ಪ ಕಳೆದು ನಿರ್ಲೇಪನ ಮಾಡಿ
ಎನ್ನ ನಿರವಯಲಲ್ಲಿ ನಿಲಿಸಿ ಪ್ರತಿಷ್ಠೆಯ ಮಾಡುವಾತನು
ನೀನೆಂಬುದು ಸತ್ಯವಚನ ನೋಡಾ.
ಗುಹೇಶ್ವರನ ಮಹಾಗಣಂಗಳಿದ್ದಲ್ಲಿಗೆ ಹೋಗಿ
ತಿಳುಹಿಕೊಂಡು ಬಾರಾ ಸಂಗನಬಸವಣ್ಣಾ. ॥೧೬೦॥

೮೫೫

ಅಹುದಹುದು,
ಭಕ್ತಿಭಾವದ ಭಜನೆ ಎಂತಿರ್ದುದಂತೆ ಅಂತರಂಗದಲ್ಲಿ ಅರಿವು.
ಆ ಅಂತರಂಗದ ಅರಿವಿಂಗೆ ಆಚಾರವೆ ಕಾಯ.
ಆಚಾರವೆಂಬ ಕಾಯವಿಲ್ಲದಡೆ ಅರಿವಿಂಗೆ ಆಶ್ರಯವಿಲ್ಲ.
ಅರಿವು ಆಚಾರದಲ್ಲಿ ಸಮವೇಧಿಸಿದ ಲಿಂಗೈಕ್ಯನ
ಕ್ರಿಯಾಬದ್ಧನೆಂದು ನುಡಿದಡೆ ಪಂಚಮಹಾಪಾತಕ.
ನಿನ್ನ ಅರಿವಿಂಗೆ ಆಚಾರವಾಗಿ, ಆಚಾರಕ್ಕೆ ಆಳಾಗಿ
ನಮ್ಮ ಗುಹೇಶ್ವರನು ನಿನ್ನ ಕೈವಶಕ್ಕೆ ಒಳಗಾದನು
ನಿನ್ನ ಸುಖಸಮಾಧಿಯ ತೋರು, ಬಾರಾ ಸಿದ್ಧರಾಮಯ್ಯ. ॥೧೬೧॥

೮೫೬

ಅಳಿಯು, ಬಳಿಯೆ ಸುಳಿವನಲ್ಲ ಪ್ರಳಯವಿಲ್ಲದ ವಿಜಯನು.
ಕುಳಾಕುಳದ ಆತ್ಮನ ಅಂಗದ ಸಂಗಿಯಲ್ಲ.
ಸುಳುಹಿನೊಳಗಣ ಸೂಕ್ಷ್ಮವ ತಿಳಿದು ನೋಡುವಡೆ
ಅಣಿಮಾದಿ ಗುಣರಹಿತನು, ಅಕಲ್ಪಿತಮಹಿಮನನೇನೆಂಬೆ ?

ನೆಳಲ ಕಳವಳದ ಬಳಿಯ ಭಾವರೂಪನಲ್ಲ !
ಬೆಳಗಿನೊಳಗಣ ಬೆಳಗು,
ಗುಹೇಶ್ವರಾ ನಿಮ್ಮ ಶರಣನ ನಿಲವು ! ॥೧೬೨॥

೮೫೭

ಅಳಿವನಲ್ಲ ಉಳವನಲ್ಲ ಘನಕ್ಕೆ ಗಮನನಲ್ಲ ಮನಕ್ಕೆ ಸಾಧ್ಯನಲ್ಲ
ತನ್ನ ತಪ್ಪಿಸಿ ಇದಿರನೊಪ್ಪಿಸಿಹೆನೆಂಬ ಭಿನ್ನಭಾವಿಯಲ್ಲ,
ಗುಹೇಶ್ವರನ ಶರಣ.
ಅಜಗಣ್ಣನ ಅಂತಿಂತೆನಬಾರದು ಕೇಳಾ ತಾಯೆ. ॥೧೬೩॥

೮೫೮

ಅಳಿವರ ಉಳಿವರ ಸುಳಿವರ ನಿಲವ ನೋಡಿ ಕಂಡು
ಸೋಂಕಿಲ್ಲದ ರೂಪಿಲ್ಲದ ನಿಜವ ಬಯಸುತ್ತಿದ್ದೆ,
ಕಾಲಿಲ್ಲದೆ ನಡೆಯುತ್ತಿದ್ದೆ, ಕಣ್ಣಿಲ್ಲದೆ ನೋಡುತ್ತಿದ್ದೆ ಗುಹೇಶ್ವರಾ. ॥೧೬೪॥

೮೫೯

ಆಕಾರನಿರಾಕಾರವೆಂಬೆರಡೂ ತಾನೆ;
ದಿಟ ದಿಟ ತಪ್ಪದು ಕೇಳಾ.
ಆಕಾರಕ್ಕೆ ಭಾವವೆ ಪ್ರಾಣ (ಪ್ರಮಾಣ?)
ನಿರಾಕಾರಕ್ಕೆ ಮಹಾಜ್ಞಾನವೆ ಪ್ರಾಣ (ಪ್ರಮಾಣ?) –
ಇಂತೀ ಉಭಯಕುಳಕ್ಕೆ ಇದು ಲಕ್ಷಣ ಕೇಳಾ.
ಎರಡರೊಳಗೆ ಆವ ಮುಖದಲ್ಲಿ ಇಪ್ಪಾತನು,
ಆ ಮುಖದಲ್ಲಿ ಶುದ್ಧನಾಗದನ್ನಕ್ಕರ
ಗುಹೇಶ್ವರಲಿಂಗಕ್ಕೆ ದೂರ ಕೇಳಾ ಸಂಗನಬಸವಣ್ಣಾ. ॥೧೬೫॥

೮೬೦

ಆಕಾಶ ಒಂದಂಡಜ, ಪೃಥ್ವಿ ಒಂದಂಡಜ (ಒಂದು ಪಿಂಡಜ?)
ಆ ಎರಡರ ಮಧ್ಯದಲ್ಲಿ ಪಕ್ಷಿ ಮರಿಗಳನಿಕ್ಕಿತ್ತ ಕಂಡೆ.
ತುಪ್ಪುಳು ಬಾರದು ಅದರೊಪ್ಪವನೇನೆಂಬೆನು ಗುರುವೆ ?
ಬಯಲನೆ ಉಡುಗಿತ್ತು ನಿರ್ವಯಲನೆ ಗೂಡು ಮಾಡಿತ್ತು,
ಉರಿಯನೆ ಉಂಡಿತ್ತು ಮಧುರಸವನೆ ಹಿಂಡಿತ್ತ ಕಂಡೆ.
ಪಕ್ಷಿಗೆ ಪಕ್ಕ ಬಂದಿತ್ತು ಗಗನಕ್ಕೆ ಹಾರಿತ್ತು !
ಹಾರಿ ಹೋಗುತ್ತ ನಮ್ಮ ಗುಹೇಶ್ವರಲಿಂಗವ ಕೂಡಿತ್ತ ಕಂಡೆ ! ॥೧೬೬॥

೮೬೧

ಆಕಾಶದಂತರಂಗದಲ್ಲಿ ತೋರುವ ಸಕಲ ವರ್ಣಂಗಳ ವರ್ಣಿಸುವರು,
ನಿರವಯದ ನಿಲವನೆತ್ತ ಬಲ್ಲರು ?
ಅರಿವನಾಶ್ರಯಿಸಿ ಮನವ ಮುಂದುಗೊಂಡು
ನೆನಹಿಂಗೆ ಗುರಿಯಾದವರೆಲ್ಲರೂ ನಿರವಯದ ನಿಲವನೆತ್ತ ಬಲ್ಲರು ?
ವರ್ಣನಾಮವಳಿಯದಾಗಿ.
ಆಕಾಶದಂತರಂಗ ಬಹಿರಂಗವೆನಲಿಲ್ಲದ ನಿರವಯವು !
ಗುಹೇಶ್ವರನೆನಲಿಲ್ಲದ ನಿಲವಿಗೆ ಸೊಲ್ಲು ಸಲ್ಲುವುದೆ ? ||೧೬೭||

೮೬೨

ಆಕಾಶದಲ್ಲಾಡುವ ಪಕ್ಷಿ ಆಕಾಶವ ನುಂಗಿ ಮಹದಾಕಾಶದಲ್ಲಾಡುತ್ತಿದ್ದಿತ್ತು.
ಆಡುವ ಪಕ್ಷಿಯೊಳಗಾದ ಆಕಾಶದ ಪಕ್ಷಿಗೆ ತೆರಪುಗೊಟ್ಟ ಮಹದಾಕಾಶವನೊಂದು
ಶಂಕೆಯಲ್ಲಿ ಷಡಾಂಗವಾ ಎಲೆಯುದುರಿದ ವೃಕ್ಷದಂತುಲುಪಡಗಿದ ಶರಣ,
ಗಗನದ ಪರಿ.
ಬೆಳಗಿನೊಳಗೆಂಬುದು ಮುನ್ನಿಲ್ಲವೋ ವಾಯುರೂಪಿನ ಪರಿಯಂತುಟಲ್ಲವೊ,
ಪ್ರಾಣಲಿಂಗ ಲಿಂಗಪ್ರಾಣವೆಂಬುದು ಮುಂದಿಲ್ಲವೊ.
ಯಥಾಲಿಂಗ ತಥಾ ಶರಣನೆಂಬುದು ಮುನ್ನಿಲ್ಲವೋ.
ನಾನೂ ಇಲ್ಲ ನೀನೂ ಇಲ್ಲ ಮತ್ತೇನೂ ಏನೂ ಇಲ್ಲವೋ
ಗುಹೇಶ್ವರನೆಂಬ ಲಿಂಗ ನಿಶ್ಚಿಂತ ನಿರ್ವಯಲವೋ. ||೧೬೮||

೮೬೩

ಆಕಾಶವನಡರುವಂಗೆ ಅಟ್ಟಗೋಲ ಹಂಗೇಕೊ ?
ಸಮುದ್ರವ ದಾಟುವಂಗೆ ಹರಿಗೋಲ ಹಂಗೇಕೊ ?
ಸೀಮೆಯ ಮೀರಿದ ನಿಸ್ಸೀಮಂಗೆ ಸೀಮೆಯ ಹಂಗೇಕೊ ?
ಗುಹೇಶ್ವರಲಿಂಗದಲ್ಲಿ ನಿಸ್ಸೀಮ ಸಿದ್ಧರಾಮಯ್ಯದೇವರಿಗೆ
ಲಿಂಗವೆಂದೇನು ಹೇಳಾ ಚನ್ನಬಸವಣ್ಣಾ ? ||೧೬೯||

೮೬೪

ಆಕಾಶವ ಮೀರುವ ತರುಗಿರಿಗಳುಂಟೆ ?
ನಿರಾಕಾರವ ಮೀರುವ ಸಾಕಾರವುಂಟೆ ?
ಗುಹೇಶ್ವರಲಿಂಗವ ಮೀರುವ ಒಡೆತನವುಂಟೆ, ಸಂಗನಬಸವಣ್ಣಾ ? ||೧೭೦||

೮೬೫

ಆಚಾರ ಅನಾಚಾರವೆಂದಡೆ ಹೇಳಿಹೆ ಕೇಳಿರಣ್ಣಾ :
ಸರ್ವಪದಾರ್ಥಂಗಳ ಇದಿರಿಟ್ಟಲ್ಲಿ ಇಷ್ಟಲಿಂಗಕ್ಕೆ ಕೊಟ್ಟು
ಪ್ರಸಾದವೆಂದು ಕೊಂಡು ಸುಯಿಧಾನವಿಲ್ಲದೆ ಸೂಸಿದಲ್ಲಿ, ದೂಷಿಸಿ
ಪ್ರಸಾದದಲ್ಲಿ ಒಳ್ಳಿತು ಹೊಲ್ಲಹ ವಿಷ ಸಿಹಿ ಹುಳಿ ಸಪ್ಪೆಯೆಂದು
ಜರೆದು ಝುಂಕಿಸಿ ಬಿಡುವ ಕರ್ಮಿಗಳು ನೀವು ಕೇಳಿರೊ –
ಜ್ಯೋತಿಯ ತಂದು ಬತ್ತಿಯ ಮುಟ್ಟಿಸಲು ಜ್ಯೋತಿಯಪ್ಪಂತೆ ಕಾಣಿರೊ
ಒಂದು ವೇಳೆ ಪ್ರಸಾದವೆಂದು ಕೊಂಡು, ಮತ್ತೊಂದು ವೇಳೆಯಲ್ಲಿ
ಎಂಜಲೆಂದು ನಿಂದಿಸುವ
ಪ್ರಸಾದದ್ರೋಹಿಗಳಿಗೆ ದೇವಭಕ್ತರೆನ್ನಲಾಗದು.
ಅವರಿಗೆ ಸೂರ್ಯಚಂದ್ರರುಳ್ಳನ್ನಕ್ಕ ನರಕ.
ಎಕ್ಕಲನರಕದಲ್ಲಿ ಮುಳುಗಾಡುತ್ತಿಪ್ಪವರ ಮುಖವನೆನಗೆ ತೋರದಿರಾ
ಗುಹೇಶ್ವರ. ॥೧೬೧॥

೮೬೬

ಆಚಾರ ಅನಾಚಾರವೆಂದು ಎರಡು ಪ್ರಕಾರವಾಗಿಪ್ಪುದು.
ಆಚಾರವೆಂದಡೆ ಹೇಳಿಹೆ ಕೇಳಿರೊ:
ಸರ್ವಪದಾರ್ಥಂಗಳು ಇದಿರಿದ್ದಲ್ಲಿ ಆ ಪದಾರ್ಥಂಗಳ ಶುದ್ಧವ ಮಾಡಿ
ಲಿಂಗಕ್ಕೆ ಸಮರ್ಪಿಸುವಲ್ಲಿ ಭೋಜ್ಯಭೋಜ್ಯಕ್ಕೆ
ಶಿವಮಂತ್ರಯುಕ್ತನಾಗಿ ಪ್ರಸಾದಗ್ರಾಹಕನಾಗಿರಬಲ್ಲಡೆ
ಆತನೆ ಪ್ರಸಾದಿ, ವೀರಮಾಹೇಶ್ವರನೆಂಬೆ.
ತಟ್ಟುವ ಮುಟ್ಟುವ ತಾಗು[ವ] ನಿರೋಧವೆಲ್ಲವನು
ಹಲ್ಲುಕಡ್ಡಿ ದರ್ಪಣ ಮೊದಲಾದ ಸರ್ವವ್ಯವಹಾರದಲ್ಲಿ
ಆವುದಾನೊಂದು ಭೋಗಿಸಲು, ಆವುದಾನೊಂದು ಕ್ರೀಡಿಸಲು
ಲಿಂಗವೆ ಪ್ರಾಣವಾಗಿರಬಲ್ಲಡೆ ಆ ಮಹಾಂತನೆ ಸರ್ವಾಚಾರಸಂಪನ್ನನೆಂಬೆ.
ಅಂತಪ್ಪ ಮಹಾತ್ಮನ ತ್ರಿವಿಧಮುಖವನರಿದು ಕರುಣಪೂರಿತನಾಗಿ
ಪ್ರಸಾದವ ಕೊಂಡಡೆ ಪಾವನವೆಂಬೆ
ಆತನ ಕೇವಲ ಮಹಾನುಭಾವ ಪರಮಜ್ಞಾನಪರಿಪೂರ್ಣನೆಂಬೆ.
ಆ ಮಹಾತ್ಮನೆ ತ್ರೈಜಗದೊಡೆಯನೆಂಬೆ ಗುಹೇಶ್ವರಾ. ॥೧೬೨॥

೮೬೭

ಆಚಾರಲಿಂಗವಿಡಿದು ಗುರುಲಿಂಗವ ಕಾಣಬೇಕು.
ಗುರುಲಿಂಗವಿಡಿದು ಶಿವಲಿಂಗವ ಕಾಣಬೇಕು.

ಶಿವಲಿಂಗವಿಡಿದು ಜಂಗಮಲಿಂಗವ ಕಾಣಬೇಕು.
ಜಂಗಮಲಿಂಗವಿಡಿದು ಪ್ರಸಾದಲಿಂಗವ ಕಾಣಬೇಕು.
ಪ್ರಸಾದಲಿಂಗವಿಡಿದು ಮಹಾಲಿಂಗವ ಕಾಣಬೇಕು.
ಇಂತೀ ಷಡುಸ್ಥಲದ ಧಾತುವ ಸಂಬಂಧಿಸಿ
ಒಂದು ಮಾಡಿಕೊಂಡಿಪ್ಪ ಈ ಕರಸ್ಥಲದ ಅನುವ
ಗುಹೇಶ್ವರನ ಶರಣ ಸಂಗನಬಸವಣ್ಣ ಬಲ್ಲ,
ಬೆಸಗೊಂಬ ಬಾರಾ ಸಿದ್ಧರಾಮಯ್ಯಾ. ॥೧೭೩॥

೮೬೮

ಆಚಾರವಂಗಲೇಪವಾಗಿ, ಕಾಯಮುಕ್ತನು ನೀನು ನೋಡಯ್ಯಾ.
ಅರಿವು ಅಂತರಂಗದಲ್ಲಿ ಭರಿತವಾಗಿಪ್ಪುದಾಗಿ,
ಮನೋಮುಕ್ತನು ನೀನು ನೋಡಯ್ಯಾ.
ಅರ್ಪಿತ ಪರಿಣಾಮದಲ್ಲಿ ಅವಿರಳವಾಗಿಪ್ಪುದಾಗಿ
ಸರ್ವಾಂಗಲಿಂಗೈಕ್ಯನು ನೀನು ನೋಡಯ್ಯಾ.
ಮುಕ್ತನಲ್ಲೆಂಬ ಬಳಕೆಯ ಮಾತಂತಿರಲಿ,
ಬಯಲ ಭ್ರಮೆಯ ಕಳೆದು ಭವದ ಬಟ್ಟೆಯ ಹರಿದಿಪ್ಪುದ
ನಮ್ಮ ಗುಹೇಶ್ವರಲಿಂಗ ಬಲ್ಲನು
ನೀನು ಮರೆಯಾಗಿ ನುಡಿವರೆ ಸಂಗನಬಸವಣ್ಣಾ. ॥೧೭೪॥

೮೬೯

ಆಚಾರವೆ ಲಿಂಗ, ಆ ಆಚಾದರಿವೆ ಜಂಗಮ
ಅಂಗವೆ ಲಿಂಗ, ಚೈತನ್ಯವೆ ಜಂಗಮ
ಆ ಜಂಗಮದ ಸೇವೆಯೆ ಲಿಂಗ, ಕೈಕೊಂಬುದೆ ಜಂಗಮ.
ನಮ್ಮ ಗುಹೇಶ್ವರನ ಶರಣರು ಮಚ್ಚುವಂತೆ,
ಮಡಿವಾಳನ ಕಾಯಕದಂತೆ, ನಿರೂಪಿಸಿದ
ಚನ್ನಬಸವಣ್ಣನ ಕರುಣದಲ್ಲಿ ಬದುಕಾ ಚಂದಯ್ಯಾ. ॥೧೭೫॥

೮೭೦

ಆಚಾರವೆ ಸ್ವರೂಪವಾದ ಕುರುಹಿನ ಅಂಗವಿಡಿದು
ಅಂಗ ಅನಂಗವೆಂಬವೆರಡನೂ ಹೊದ್ದದ ಮಹಿಮ
ನೀನು ನೋಡಾ, ಚೆನ್ನಬಸವಣ್ಣಾ !

ಅಂಗವೆ ಆಚಾರವಾಗಿ ಇರಬಲ್ಲ
ಆಚಾರವೆ ಅಂಗವಾಗಿ ಇರಬಲ್ಲೆಯಾಗಿ
ಅಂಗವಿಲ್ಲದ ಅಪ್ರತಿಮನು ನೀನು ನೋಡಾ.
ಆಚಾರವೆ ಆಯತ ಆಚಾರವೆ ಸ್ವಾಯತ
ಆಚಾರವೆ ಸನ್ನಿಹಿತ ಆಚಾರವೆ ಪ್ರಾಣವಾಗಿಪ್ಪೆಯಾಗಿ
ಎನ್ನ ಗುಹೇಶ್ವರಲಿಂಗದಲ್ಲಿ ನಿನ್ನ ಆಚಾರ ಭಿಕ್ಷವನಿಕ್ಕು
ಚೆನ್ನಬಸವಣ್ಣಾ. ॥೧೭೬॥

೮೭೧

ಆಚಾರ ಸನ್ನಹಿತವಾಗಿ ಬಂದಡೆ,
ಜಂಗಮ ಬೇರಲ್ಲದಿರ್ದಡೆ ಭೂತಪ್ರಾಣಿ ಎಂಬೆ.
ಅರ್ತಿಯಲ್ಲಿ ಲಿಂಗವೆ ಜಂಗಮವೆಂದರಿದು ಮಾಡುವಲ್ಲಿ,
ಭಕ್ತನಲ್ಲದಿರ್ದಡೆ ಫಲದಾಯಕನೆಂಬೆ.
ಸ್ಥಾವರ ಜಂಗಮ ಒಂದೆ ಎನಬಲ್ಲಡೆ, ಶರಣ ಸಂಬಂಧಿ,
ಅಲ್ಲದಿರ್ದಡೆ ಪೂಜಕನೆಂಬೆ.
ಇಂತೀ ತ್ರಿವಿಧ ನಿರ್ಣಯದ ಸೋಂಕಿನ ಸುಖವ,
ಗುಹೇಶ್ವರ ಲಿಂಗದಲ್ಲಿ ಬಸವಣ್ಣನೊಬ್ಬನೆ ಬಲ್ಲನು. ॥೧೭೭॥

೮೭೨

ಆಡಿಂಗೆ ದಾಯಾದ್ಯರಾದಿರಲ್ಲಾ.
ಕಾಡ ಗಿಡುವಿಂಗೆ ಮೃತ್ಯುವಾದಿರಲ್ಲಾ.
ಅರಿವನರಿಯ ಹೇಳಿ,
ಶ್ರೀಗುರು ಕುರುಹ ಕೈಯಲ್ಲಿ ಕೊಟ್ಟಡೆ
ಅರಿವನೆ ಮರೆದು ಕುರುಹ ಪೂಜಿಸುವ
ಕುರಿಗಳ ನೋಡಾ ಗುಹೇಶ್ವರಾ. ॥೧೭೮॥

೮೭೩

ಆಣವಮಲ ಮಾಯಾಮಲ ಕಾರ್ಮಿಕಮಲವೆಂಬ
ಮಲತ್ರಯಂಗಳಳಿದು ನಿರ್ಮಲನಾದ ಶಿಷ್ಯ:–

ಕಾಯಜೀವದ ಭ್ರಾಂತುಸೂತಕ ಹಿಂಗಿ
ನಿಶ್ಯಂಕನಾದ ಗುರು–
ಈ ಉಭಯ ಭಾವದೊಳಗೆ
ಆವುದು ಮುಂದು ಆವುದು ಹಿಂದೆಂದರಿಯಬಪ್ಪುದು ?
ಕರಸ್ಥಲಕ್ಕೆ ಕಾರುಣ್ಯವ ಮಾಡಿದಡೆ ಮನಸ್ಥಲಕ್ಕೆ ಹಂಗಿಲ್ಲ.
ಮನಸ್ಥಲದಲ್ಲಿ ಸೆರಗೊಡ್ಡಿ ಬೇಡಿರ್ದಡೆ
ಕರಸ್ಥಲದ ಲಿಂಗ ಕೈಸಾರಿತ್ತು !
ಗುರುಸ್ಥಲದ ನಿಲವು ಪರಸ್ಥಲದಲಡಗಿದರೆ
ಭಾವ ಬಳಲಿತ್ತಿದೇನೊ (ಬೆರಗಾಯಿತ್ತು?) ಗುಹೇಶ್ವರಾ. ? ॥೧೭೯॥

೮೭೪

ಆತ್ಮನೆಂಬ ಹುತ್ತಿನೊಳಗೆ
ನಿದ್ರೆಯೆಂಬ ಕಾಳೋರಗನಟ್ಟಿ ಕಚ್ಚಿ,
ಅಂಜನಸಿದ್ಧರ [ಅಂಜನ] ಹೋಯಿತ್ತು.
ಘುಟಿಕಾಸಿದ್ಧರ ಘುಟಿಕೆಯುರುಳಿ ಬಿದ್ದಿತ್ತು.
ಮಂತ್ರಸಿದ್ಧರ ಮಂತ್ರ ಮರೆದು ಹೋದವು.
ಇದರ ವಿಷವ ಪರಿಹ [ರಿಸಿದವರ ಕಾ]ಣೆ.
ಈ ರಾಹುವಿನ ವಿಷದಿಂದ ಮೂರು ಲೋಕದವರೆಲ್ಲರೂ
ಮೂರ್ಛಾಗತವಾದುದ ಕಂಡು
ನಾನು ಪರಮಭಕುತಿಭಿಕ್ಷೆಯನುಂಡು
ಮಂಡೆ ಬೋಳಾದೆನು ಕಾಣಾ ಗುಹೇಶ್ವರಾ. ॥೧೮೦॥

೮೭೫

ಆತ್ಮಸಂಗವಾದವರ್ಗೆ ಬಹಿರ್ಭಾವವಿಲ್ಲ.
ಇಂದ್ರಿಯಂಗಳು ಲಿಂಗವಾದವರ್ಗೆ ವಿಷಯಸೂತಕವಿಲ್ಲ.
ಕರಣಂಗಳು ಲಿಂಗವಾದವರ್ಗೆ ಹಿಂದು ಮುಂದೆಂಬ ಸಂದೇಹವಿಲ್ಲ.
ಲಿಂಗಾಲಯವು ಮನವಾದವರ್ಗೆ ಇಹಪರವೆಂಬ ಸಂಶಯವಿಲ್ಲ.
ಲೋಕದಂತೆ ನಡೆವರು ಲೋಕದಂತೆ ನುಡಿವರು,
ಮನವು ಮಹಾಲಿಂಗದಲ್ಲಿ ಪರಿಣಾಮಿಗಳು !
ಅಂತಪ್ಪ ಮಹಾನುಭಾವಿಗಳ ಲೋಕದ ಪ್ರಪಂಚಿಗಳೆಂದಡೆ
ಮನೋಮಧ್ಯದಲ್ಲಿಪ್ಪ ಜ್ಯೋತಿರ್ಲಿಂಗವು ನಗದಿಪ್ಪನೆ ಗುಹೇಶ್ವರಾ ? ॥೧೮೧॥

೮೭೬

ಆದಿ ಅನಾದಿ ಎಂಬೆರಡರ ಮೂಲವನೆತ್ತಿ ತೋರಿದನಯ್ಯಾ ಬಸವಣ್ಣನು.
ಆದಿ ಲಿಂಗ ಅನಾದಿ ಜಂಗಮವೆಂಬ (ಶರಣನೆಂಬ?) ಭೇದವ,
ವಿವರಿಸಿ ತೋರಿದನಯ್ಯಾ ಬಸವಣ್ಣನು.
ಕಾಯದ ಜೀವದ ಸಂಬಂಧವ,
ಅಸಂಬಂಧವ ಮಾಡಿ ತೋರಿದನಯ್ಯಾ ಬಸವಣ್ಣನು.
ಎನ್ನ ಆದಿ ಅನಾದಿಯನು ಬಸವಣ್ಣನಿಂದರಿದು
ಗುಹೇಶ್ವರಲಿಂಗದಲ್ಲಿ ಸುಖಿಯಾದೆನು ಕಾಣಾ ಚನ್ನಬಸವಣ್ಣ. ॥೧೮೨॥

೮೭೭

ಆದಿ ಅನಾದಿಗಳಿಲ್ಲದಂದಿನ ಕೂಗು;
ನಾದ ಬಿಂದುಗಳಿಲ್ಲದಂದಿನ ಕೂಗ ಕಂಡು ಕೂಗಿದೆ !
ಇಡಾ ಪಿಂಗಳ ಸುಷುಮ್ನನಾಳಮಧ್ಯದ ಕೂಗ ಕಂಡು ಕೂಗಿದೆ.
ಗುಹೇಶ್ವರನೆಂಬ ತಲೆವೊಲನ ದಾಂಟಿ
ಅಲ್ಲಮ ಕೂಗಿದ ಕೂಗು ! ॥೧೮೩॥

೮೭೮

ಆದಿ ಅನಾದಿಯೆಂಬ (ಯೆಂಬುದ?) ಅಂತರಾತ್ಮನಲ್ಲಿ ತಿಳಿಯಲರಿಯದೆ
ಆದಿ ದೈವವೆಂದು ಬರಿಯ ಬಹಿರಂಗದ ಬಳಕೆಯನೆ ಬಳಸಿ,
ಅನ್ಯ ದೈವಂಗಳನಾರಾಧಿಸಿ ಕೆಡುತ್ತಿಪ್ಪರು ನೋಡಾ.
ಅದಕೆ ತಪ್ಪೇನು, ಮಕ್ಕಳಿಗೆ ತಮ್ಮ ಮಾತೆಯೇ ದೈವ.
ಮಾತೆಗೆ ತನ್ನ ಪುರುಷನೆ ದೈವ, ಪುರುಷಂಗೆ ತನ್ನ ಪ್ರಭುವೆ ದೈವ.
ಪ್ರಭುವಿಗೆ ತನ್ನ ಪ್ರಧಾನನೆ ದೈವ, ಪ್ರಧಾನಂಗೆ ತನ್ನ ರಾಯನೆ ದೈವ.
ರಾಯಂಗೆ ತನ್ನ ಲಕ್ಷ್ಮಿಯೆ ದೈವ, ಲಕ್ಷ್ಮಿಗೆ ತನ್ನ ವಿಷ್ಣುವೆ ದೈವ.
ವಿಷ್ಣುವಿಗೆ ತನ್ನ ರುದ್ರನೆ ದೈವ, ಆ ರುದ್ರಂಗೆ ತನ್ನ ಈಶ್ವರನೆ ದೈವ.
ಈಶ್ವರಂಗೆ ತನ್ನ ಸದಾಶಿವನೆ ದೈವ, ಸದಾಶಿವಂಗೆ ತನ್ನ ಸರ್ವಗತ ಶಿವನೆ ದೈವ.
ಸರ್ವಗತ ಶಿವನಿಗೆ ಆಕಾಶಮಹಿಪತಿಯೆಂಬ ಮಹಾಲಿಂಗಕ್ಕೆ
ಆದಿ ದೇವರುಳ್ಳಡೆ ಹೇಳಿರೆ, ಇಲ್ಲದಿರ್ದಡೆ ಸುಮ್ಮನೆ ಇರಿರೆ.
ಇದು ಕಾರಣ ಷಡುದರುಶನದ ಚರಾಚರಾದಿಗಳೆಲ್ಲರೂ
ತಮ ತಮಗಿಷ್ಟ ಕಾಮ್ಯವ ಕೊಡುವುದಕ್ಕೆ
ವರವುಳ್ಳ ದೇವರೆಂದು ಬೆರವುತ್ತಿಹರು.

ಅದಕ್ಕೆ ತಪ್ಪೇನು ಅವರಿಗಪ್ಪಂಥ,
ವರವೀವುದಕ್ಕೆ ಸತ್ಯವುಳ್ಳವನಹುದು.
ಆದಡೇನು, ಪ್ರಾಣಕ್ಕೆ ಪರಿಣಾಮವ ಕೊಡಲರಿಯವು.
ಅವರ ಕೈಯಲ್ಲಿ ಆರಾಧಿಸಿಕೊಂಬ ದೈವಂಗಳೆಲ್ಲವು.
ಪೃಥ್ವಿ ಅಪ್ಪು ತೇಜ ವಾಯು ಆಕಾಶ ಮನವೆಂಬಾರರ ಹಂಗಿನಲ್ಲಿ ಸಿಕ್ಕಿ,
ವಿಭೂತಿಯನ್ನಿಟ್ಟು, ರುದ್ರಾಕ್ಷಿಯಂ ತೊಟ್ಟು
ಜಪತಪ ಹೋಮ ನೇಮಂಗಳ ಮಾಡಿ
ಮಾರಣ ಮೋಹನ ಸ್ತಂಭನ ಉಚ್ಚಾಟನ
ಅಂಜನ ಸಿದ್ಧಿ, ಘುಟಿಕಾ ಸಿದ್ಧಿ, ಮಂತ್ರಸಿದ್ಧಿ, ದೂರದೃಷ್ಟಿ
ದೂರ ಶ್ರವಣ, ಕಮಲದರ್ಶನ, ತ್ರಿಕಾಲಜ್ಞಾನ,
ಪರಕಾಯಪ್ರವೇಶವೆಂಬ
ಅಷ್ಟಮಹಾಸಿದ್ಧಿಗಳಂ ಲಿಂಗಧಲ್ಲಿ ವರಂಬಡೆದು
ತಮ್ಮ ಬೇಡಿದವರಿಗೆ ಕೊಟ್ಟು ತಮ್ಮಿಂದ ಹಿರಿಯರಿಗೆ ನಮಸ್ಕರಿಸಿ,
ತಮ್ಮಿಂದ ಕಿರಿಯರಿಗೆ ದೇವರೆಂದು ಬೆರವುತ್ತಿಹರು.
ಕಿರಿದುದಿನ ಅವರ ದೇವರೆನ್ನಬಹುದೆ ?
ದೇಹಕೇಡಿಗಳ ಸತ್ಯರೆಂದೆನಬಹುದೆ ?
ಅಸತ್ಯದಲ್ಲಿ ಅಳಿದವರ ಭಕ್ತರೆಂದೆನಬಹುದೆ ?
ಬಹುರೂಪಿನ ಕಪಟಿಗಳ ನಿತ್ಯರೆನಬಹುದೆ ?
ದಿನದಿನಕ್ಕೆ ಸತ್ತು ಸತ್ತು ಹುಟ್ಟುವವರ.
ಅದೆಂತೆಂದಡೆ:
ಬ್ರಹ್ಮನ ಜಾವವೊಂದಕ್ಕೆ ಒಬ್ಬ ಇಂದ್ರನಳಿವ
ವಿಷ್ಣುವಿನ ಜಾವವೊಂದಕ್ಕೆ ಒಬ್ಬ ಬ್ರಹ್ಮನಳಿವ
ರುದ್ರನ ಜಾವವೊಂದಕ್ಕೆ ಒಬ್ಬ ವಿಷ್ಣುವಳಿವ
ಈಶ್ವರನ ಜಾವವೊಂದಕ್ಕೆ ಒಬ್ಬ ರುದ್ರನಳಿವ
ಸದಾಶಿವನ ಜಾವವೊಂದಕ್ಕೆ ಒಬ್ಬ ಈಶ್ವರನಳಿವ
ಸರ್ವಗತನ ಜಾವವೊಂದಕ್ಕೆ ಒಬ್ಬ ಸದಾಶಿವನಳಿವ
ಲಿಂಗ ಶರಣರ ಒಂದು ನಿಮಿಷಕ್ಕೆ ಒಬ್ಬ ಸರ್ವಗತನಳಿವ
ಲಿಂಗ ಶರಣರಿಗೆ ಅಳಿವುಳ್ಳಡೆ ಹೇಳಿರೆ ?
ಇಲ್ಲದಿರ್ದಡೆ ಸುಮ್ಮನಿರಿರೆ.
ಅಂತಪ್ಪ ಮಹಾಲಿಂಗವನು ಶರಣರನು ಅರಿಯದೆ
ಷಡುದೇವತೆಗಳು ಮುಖ್ಯವಾದ ಮನು ಮುನಿ ದೇವ ದಾನವ
ಮಾನವರೆಲ್ಲರೂ ಅರಿಸಿ ತೊಳಲಿ ಬಳಲುತ್ತಿಪ್ಪರು.

ಅದು ಹೇಗೆಂದಡೆ:
ಬ್ರಹ್ಮ ವೇದದಲ್ಲರಸುವನು.
ವಿಷ್ಣು ಪೂಜೆಯಲ್ಲರಸುವನು.
ರುದ್ರ ಜಪದಲ್ಲರಸುವನು.
ಈಶ್ವರ ನಿತ್ಯನೇಮದಲ್ಲರಸುವನು.
ಸದಾಶಿವನು ನಿತ್ಯ ಉಪಚಾರದಲ್ಲರಸುವನು.
ಸರ್ವಗತ ಶೂನ್ಯದಲ್ಲರಸುವನು.
ಗೌರಿ ತಪದಲ್ಲರಸುವಳು, ಗಂಗೆ ಉಗ್ರದಲ್ಲರಸುವಳು.
ಚಂದ್ರ ಸೂರ್ಯರು ಹರಿದರಸುವರು.
ಇಂದ್ರ ಮೊದಲಾದಷ್ಟದಿಕ್ಪಾಲಕರು ಆಗಮ್ಯದಲ್ಲರಸುವರು
ಸಪ್ತ ಮಾತೃಕೆಯರು 'ಓಂ ಫಟು ಸ್ವಾಹಾ' ಎಂಬ ಮಂತ್ರದಲ್ಲರಸುವರು.
ಸತ್ಯಋಷಿ ದಧೀಚಿ ಗೌತಮ ವಶಿಷ್ಠ ವಾಲ್ಮೀಕಿ ಅಗಸ್ತ್ಯ ವಿಶ್ವಾಮಿತ್ರ
ಇವರು ಮೊದಲಾದ ಸಪ್ತಋಷಿಯರುಗಳೆಲ್ಲಾ
ತಪ, ಯೋಗ, ಆಗಮಂಗಳಲ್ಲಿ ಅರಸುವರು.
ಇಂತಿವರೆಲ್ಲರಿಗೆಯೂ ಸಿಕ್ಕಿಯೂ ಸಿಕ್ಕದ ಘನವು
ಶುಕ್ಲ ಶೋಣಿತವಿಲ್ಲದ ಕಾಮಿ, ಒಡಲಿಲ್ಲದ ರೂಪು,
ತಲೆಯಿಲ್ಲದ ಗಜ, ಬಾಲವಿಲ್ಲದ ಸಿಂಹ, ನಿದ್ರೆಯಿಲ್ಲದ ನಿರಾಳ.
ಇಂತೀ ಭೇದಮಂ ಭೇದಿಸಿ ನೋಡಬಲ್ಲಡೆ ಕಣ್ಣ ಮೇಲೆ ಕಣ್ಣುಂಟು.
ಮತ್ತಾ ಕಣ್ಣ ತೆರೆದು
ಅಮೃತಕಾಯದೃಷ್ಟಿಯಲ್ಲಿ ನೋಡಿದಡೊಂದೂಯಿಲ್ಲ.
ನಮ್ಮ ಗುಹೇಶ್ವರ ಲಿಂಗವು ಬಚ್ಚಬರಿಯ ಬಯಲು
ನಿಶ್ಚಿಂತ ನಿರಾಳನು. ||೧೮೪||

೮೭೫

ಆದಿ ಅನಾದಿ ಷಡುದೇವತೆಗಳಿಲ್ಲದಂದು,
ಒಬ್ಬ ಶರಣ ಷಡಕ್ಷರವನು ಷಡುಸ್ಥಲವನು
ಒಳಕೊಂಡು ಇರ್ದನಯ್ಯಾ.
ಆ ಶರಣನ ನೆನಹಿನ ಲೀಲೆಯಿಂದ
ಪರಶಿವನ ಮೂಲಜ್ಞಾನ ಪಂಚಶಕ್ತಿಗಳಾಗಿ
ತೋರಿ ಬೆರಸಿದ್ದವಯ್ಯಾ,
ಇದ್ದ ಕಾರಣ ಶರಣನ ಪರಮಶಾಂತಿ
ಭಕ್ತ್ಯಂಗನೆಯಾಗಿ ತೋರಿ ಬೆರಸಿದ್ದಳಯ್ಯ.

ಇದ್ದ ಕಾರಣ ಶರಣನ ಮಹಾಬೆಳಗು
ಷಡುಸ್ಥಲಬ್ರಹ್ಮಗಳಾಗಿದ್ದಿತಯ್ಯಾ.
ಇದ್ದ ಕಾರಣ ಶರಣನ ಪರಶಿವನ ಶಕ್ತಿಗಳ ಮಹಾಬೆಳಗು
ಷಡುಭಕ್ತ್ಯಂಗನೆಯಾಗಿ ಷಡುಸ್ಥಲ ಭಕ್ತರ ಬೆರಸಿದ್ದವಯ್ಯಾ.
ಇದ್ದ ಕಾರಣ ಶರಣನೊಳಡಗಿದ ಸುವಾಕುವಕ್ಷರ
ಲಿಂಗ ಪ್ರಣಮ ಮಂತ್ರ ಚಕ್ರ ಕಮಲ ಸತ್ಕ್ರೀ ಭಸಿತ ರುದ್ರಾಕ್ಷಿ
ಇಂತಿವೆಲ್ಲಾ ಇವರೊಳಗಡಗಿದ್ದವಯ್ಯಾ.
ಇದ್ದ ಕಾರಣ ಶರಣನಿವರು ಸಹಿತ ಕೋಟಾನುಕೋಟಿ ಕಾಲವು
ಪ್ರಮಥಗಣೇಶ್ವರನೆಂಬ ನಾಮವಾಗಿರುತ್ತಿರ್ದನಯ್ಯಾ,
ನಿಮ್ಮ ಶರಣ ಗುಹೇಶ್ವರಾ. ॥೧೮೫॥

೮೮೦

ಆದಿ ಅನಾದಿ ಸಂಗದಿಂದಾದವನಲ್ಲ.
ಸಂಗಸುಖದೊಳಗಿರ್ದವನಲ್ಲ.
ಇಬ್ಬರ ಸಂಗದಿಂದಾದವನಲ್ಲ.
ರವಿ ಶಶಿಯ ಬೆಳಗಿನಿಂದ ಬೆಳೆದವನಲ್ಲ.
ನಾದ ಬಿಂದು ಕಳೆ ಹುಟ್ಟದ ಮುನ್ನ
ಅಲ್ಲಿಂದತ್ತತ್ತ ಗುಹೇಶ್ವರಾ ನಿಮ್ಮ ಶರಣ. ॥೧೮೬॥

೮೮೧

ಆದಿ ಅನಾದಿ ಹದಿನಾಲ್ಕುಲೋಕ ಕಾಲ ಕಲ್ಪಿತ ಮಂತ್ರ ತಂತ್ರ
ಓದು, ನೇಮ, ಸಂಧ್ಯಾ ಸಮಾಧಿ ಮೌಂಜಿ ಕರ್ಮ
ನೀರು ನೇಣು ಯಜ್ಞೋಪವೀತ ಹುಟ್ಟದಂದು
ಒಬ್ಬ ಶರಣ ಭಕ್ತಿಯ ಮಾಡುತ್ತಿಪ್ಪುದ ಕಂಡೆನಯ್ಯಾ.
ಆ ಶರಣನ ಭಕ್ತಿಯೆಂಬ ಚಿತ್ಪಿಂಡದೊಳಗೆ
ಎರಡುಸಾವಿರದೆಂಟುನೂರು ಕೋಟಿ ಯೋಜನದುದ್ದದೊಂದು
ಮಹಾಲೋಕದಿಂದತ್ತಲರಿಯದಿಪ್ಪ
ಷಡುಸಾದಾಖ್ಯನಾಯಕರ ಹೆಂಡಿರೆಲ್ಲಾ
ಮೊಲೆದೆಗೆದು (ಒಲಿದೆಗೆದು?) ಹೋಯಿತ್ತ ಕಂಡೆ ಗುಹೇಶ್ವರಾ. ॥೧೮೭॥

೮೮೨

ಆದಿ ಗುರುಸ್ಥಲ ಲಿಂಗಸ್ಥಲ ಜಂಗಮಸ್ಥಲ
ಪ್ರಸಾದಸ್ಥಲ ಪಾದೋದಕಸ್ಥಲಂಗಳನಾರು ಬಲ್ಲರಯ್ಯಾ ?

ಆದಿಯ ತೋರಿದ, ಅನಾದಿಯನರುಪಿದ,
ನಾದ ಬಿಂದು ಕಳೆಗಳ ಭೇದಮಂ ಭೇದಿಸಿ ತೋರಿದ,
ಹುಟ್ಟುವುದ ಮುಟ್ಟದೆ ತೋರಿದ
ಹುಟ್ಟದೆ ಇದ್ದುದ ಮುಟ್ಟಿ ತೋರಿದ.
ಎನ್ನ ಅಂತರಂಗವನನುಮಾಡಿ ನಿಜಲಿಂಗವ ನೆಲೆಗೊಳಿಸಿದ.
ಗುಹೇಶ್ವರನ ಶರಣ ಸಂಗನಬಸವಣ್ಣನಿಂದ
ಸಕಲಸನುಮತವನರಿದೆನಯ್ಯಾ. ॥೧೮೨॥

೮೮೩

ಆದಿಗೆ ಅನಾದಿಗೆ ಭೇದವುಂಟೆ ?
ಆದಿ ಲಿಂಗ ಅನಾದಿ ಶರಣನೆಂಬುದು,
ತನ್ನಿಂದ ತಾ ಮಾಡಲಾಯಿತ್ತು.
ಧರೆಯಾಕಾಶ ಭುವನ ಭವನಂಗಳು ಹುಟ್ಟದ ಮುನ್ನ
ಅನಾದಿ ಪರಶಿವನು ತಾನೆ ತನ್ನ ಲೀಲೆಗೆ ಸಾಕಾರವ ಧರಿಸಿದಡೆ
ಆ ಸಾಕಾರವೆ ಈ ಸಾಕಾರವಾಯಿತ್ತು.
ಎನ್ನ ಸಾಕಾರದ ಆದಿಯನೂ, ಎನ್ನ ನಿರಾಕಾರದ ಆದಿಯನೂ
ಬಸವಣ್ಣ ಬಲ್ಲವನಾಗಿ,
ಗುಹೇಶ್ವರಲಿಂಗದ ಘನವು ಬಸವಣ್ಣನಿಂದೆನಗೆ ಸಾಧ್ಯವಾಯಿತ್ತು
ಕಾಣಾ ಚನ್ನಬಸವಣ್ಣಾ ! ॥೧೮೯॥

೮೮೪

ಆದಿ ಜಂಗಮ ಅನಾದಿ ಭಕ್ತನೆಂಬುದನಾರು ಬಲ್ಲರು
ಹೇಳಾ ಬಸವಣ್ಣಾ ನೀನಲ್ಲದೆ ?
ನಿತ್ಯನಿರಾಕಾರ ಘನವು ಶಕ್ತಿಯಿಲ್ಲದೆ ಇದ್ದಡೆ,
ಆಗಲೆ ಬಯಲಾದಹುದೆಂದು,
ನೀನು ಘನಚೈತನ್ಯವೆಂಬ ಕಾಯವ ಧರಿಸಿದಡೆ,
ಆ ಬಯಲು ಪರಬ್ರಹ್ಮವೆಂಬ ನಾಮವನೆಯ್ದಿತ್ತು.
ಆ ಮಹಾಘನವು ತನ್ನ ವಿನೋದದಿಂದ ಸಾಕಾರವನೆಯ್ದಿದಡೆ,
[ನೀನು] ಧರ್ಮವೆಂಬ ಕಾಯವ ಧರಿಸಿ, ಆ ಮೂರ್ತಿಗೆ ಆಧಾರವಾದೆಯಾಗಿ
ಜಗದ ಕರ್ತ ಶಿವನೆಂಬ ನಾಮವಾಯಿತ್ತಲ್ಲಾ ಬಸವಣ್ಣಾ.
ಜಂಗಮವೆ ಲಿಂಗವೆಂದು ನೀನು ಭಾವಿಸಲಾಗಿ,
ನಿನ್ನ ಸನ್ನಿಧಿಯಿಂದ ಪ್ರತಿನಿಧಿಯಾಯಿತ್ತು ನೋಡಾ ಬಸವಣ್ಣಾ.
ಲಿಂಗವ ಹಿಡಿದು ನೀನು ಪೂಜಿಸಲಾಗಿ,

ಲಿಂಗವು ಹೆಸರುವಡೆಯಿತ್ತು, ನೋಡಾ ಬಸವಣ್ಣಾ.
ಪ್ರಸಾದವನು ನೀನು ಕೊಂಡು ಪಥವ ತೋರಿದೆಯಾಗಿ
ಪ್ರಸಾದವು ಹೆಸರಾಯಿತ್ತು, ನೋಡಾ ಬಸವಣ್ಣಾ.
ಇದು ಕಾರಣ ನೀನೆ ಅನಾದಿ ಭಕ್ತ, ನಾನೆ ಅನಾದಿಯಿಂದತ್ತತ್ತ !
ನೀನು ಮಾಡಲಾಗಿ ಆನಾದೆನೆಂಬುದ
ನಮ್ಮ ಗುಹೇಶ್ವರಲಿಂಗವು ಬಲ್ಲ ಕಾಣಾ ಸಂಗನಬಸವಣ್ಣ. ||೧೯೦||

೮೮೫

ಆದಿತ್ಯವಾರ ಸೋಮವಾರ ಮಂಗಳವಾರವೆಂದು,
ಏಳು ವಾರವ ಹೆಸರಿಟ್ಟು ನುಡಿವರು, ನಾವಿದನರಿಯೆವು.
ಗುಹೇಶ್ವರನ ಶರಣ ಚೆನ್ನಬಸವಣ್ಣಂಗೆ ಮೂರೇ ವಾರ, ||೧೯೦||

೮೮೬

ಆದಿಯ ಅಂಗಮುಖಕ್ಕರ್ಪಿಸಿ, ಅನಾದಿಯ ಪ್ರಾಣ ಮುಖಕ್ಕರ್ಪಿಸಿ,
ಮನವೆಂಬುದ ಅರಿವಿನ ಮುಖಕ್ಕರ್ಪಿಸಿ,
ತಾನೆಂಬುದ ನಿರಾಕಾರದಲ್ಲಿ ನಿಲಿಸಿ,
ಪರಿಣಾಮಪ್ರಸಾದದಲ್ಲಿ ತದ್ಗತವಾಗಿ,
ಪ್ರಸಾದವೆ ಪ್ರಾಣವಾಗಿ ಪ್ರಸಾದವೆ ಕಾಯವಾಗಿ,
ಪ್ರಸಾದವೆ ಜ್ಞಾನವಾಗಿ ಪ್ರಸಾದವೆ ಧ್ಯಾನವಾಗಿ,
ಪ್ರಸಾದವೆ ಲಿಂಗಭೋಗೋಪಭಾಗವಾಗಿಪ್ಪ,
ನಮ್ಮ ಗುಹೇಶ್ವರಲಿಂಗದಲ್ಲಿ ನಿಜಪ್ರಸಾದಿ
ಮರುಳಶಂಕರದೇವರ ನಿಲವ ನೋಡಾ ಸಂಗನಬಸವಣ್ಣಾ. ||೧೯೨||

೮೮೭

ಆದಿಯ ಕಂಡೆ, ಅನಾದಿಯ ಕಂಡೆ
ಘನವ ಕಂಡೆ, ಮನವ ಕಂಡೆ, ಅನುವ ಕಂಡೆ
ಆಯತ ಸ್ವಾಯತ ಸನ್ನಹಿತವ ಕಂಡೆ.
ಗುಹೇಶ್ವರಲಿಂಗದಲ್ಲಿ ಬಸವಣ್ಣನ ಕೃಪೆಯಿಂದ,
ನಿನ್ನ ಕಂಡೆ ಕಾಣಾ ಮಡಿವಾಳ ಮಾಚಯ್ಯಾ. ||೧೯೩||

೮೮೮

ಆದಿಯ ತೋರಿದೆ, ಅನಾದಿಯನರುಹಿದೆ.
ಇಹವ ಕೆಡಿಸಿದೆ ಪರವ ನಿಲಿಸಿದೆ

ಕಾಯಪ್ರಸಾದ ಭಾವಪ್ರಸಾದ ಜ್ಞಾನಪ್ರಸಾದವನು
ಏಕವ ಮಾಡಿ ತೋರಿದೆ.
ಪರವನೊಳಕೊಂಡು ಪರಿಣಾಮದಲ್ಲಿರಿಸಿದೆ.
ಗುಹೇಶ್ವರನ ಶರಣ ಸಂಗನಬಸವಣ್ಣನ ಪೂರ್ವಾಪರವ ಹೇಳಿ
ಎನ್ನನುಳಿಹಿಕೊಳ್ಳಾ ಚನ್ನಬಸವಣ್ಣಾ. ॥೧೯೪॥

೮೮೯

ಆದಿಯನರಿಯದೆ,
ಅನಾದಿಯಿಂದತ್ತತ್ತ ತಾನಾರೆಂಬುದ ವಿಚಾರಿಸಿ ತಿಳಿದು ನೋಡದೆ;
ಮಾಡಿದಡೆ ಫಲವೇನಯ್ಯಾ ಬಸವಯ್ಯಾ ?
ಸಾವನ್ನಕ್ಕ ಸಾಧನೆಯ ಮಾಡಿದಡೆ,
ಕಾದುವ ದಿನ ಇನ್ನಾವುದಯ್ಯಾ ಬಸವಯ್ಯಾ ?
ಬಾಳುವನ್ನಕ್ಕ ಭಜನೆಯ ಬಾಡಿದಡೆ
ತಾನಹ ದಿನ ಇನ್ನಾವುದಯ್ಯಾ ಬಸವಯ್ಯಾ ? –
ಇದು ಕಾರಣ,
ಮರ್ತ್ಯಲೋಕದ ಭಕ್ತರುಗಳೆಲ್ಲರು, ತಥ್ಯವನರಿಯದೆ,
ಮಿಥ್ಯವನೆ ಹಿಡಿದು ಮಿಥ್ಯವನೆ ಪೂಜಿಸಿ ವ್ಯರ್ಥರಾಗಿ ಹೋದರು,
ತಮ್ಮ ತಾವರಿಯದೆ ಕೆಟ್ಟರು.
ತಲೆಯ ಕೊಯಿದು ದೇಹವ ಕಡಿದು, ಕಣ್ಣ ಕಳೆದು
ಹೊಟ್ಟೆಯ ಸೀಳಿ, ಮಗನ ಕೊಂದು ಬಾಣಸವ ಮಾಡಿ,
ವಾದಿಗೆ ಪುರಂಗಳನೊಯ್ದು,
ಕಾಯವೆರಸಿ ಕೈಲಾಸಕ್ಕೆ ಹೋದವರೆಲ್ಲರು ಭಕ್ತರಪ್ಪರೆ ?
ಅವರಿಗೆ ಶಿವಪಥವು ಸಾಧ್ಯವಾಯಿತ್ತೆ ? ಭವ ಹಿಂಗಿತ್ತೆ ?
ಅದು ಸಹಜವೆ ? – ಅಲ್ಲಲ್ಲ ನಿಲ್ಲು ಮಾಣು.
ನರಲೋಕದವರೆಲ್ಲರು ನರಸಂಸಾರಕ್ಕೊಳಗಾದರು,
ಸುರಲೋಕದ ಸುರರುಗಳೆಲ್ಲ ಸುರಸಂಸಾರಕ್ಕೊಳಗಾದರು,
ರುದ್ರಲೋಕದ ರುದ್ರರುಗಳೆಲ್ಲ ರುದ್ರಸಂಸಾರಕ್ಕೊಳಗಾದರು,
ಮುನಿಜನಂಗಳೆಲ್ಲರು ತಪವೆಂಬ ಸಂಸಾರಕ್ಕೊಳಗಾದರು,
ಜಂಗಮವ ಹಿಡಿದವರೆಲ್ಲರು ಸಾಯುಜ್ಯವೆಂಬ ಸಂಸಾರಕ್ಕೊಳಗಾದರು,
ಲಿಂಗವ ಹಿಡಿದವರೆಲ್ಲರು ಫಲ – ಪದಗಳೆಂಬ ಸಂಸಾರಕ್ಕೊಳಗಾದರು,
ಇಂತೀ ಸಂಸಾರಕ್ಕೊಳಗಾದವರೆಲ್ಲ ಮಾಯೆಯ ಹೊಡೆಗಿಚ್ಚ ಗೆಲಬಲ್ಲರೆ ?
ಇದು ಕಾರಣ: ನಿತ್ಯ ನಿಜತತ್ವ ತಾನೆಂದರಿಯದೆ, 'ತತ್ವಮಸಿ' ವಾಕ್ಯವ

ಹೊರಹೊರಗನೆ ಬಳಸಿ ಕೆಟ್ಟರಲ್ಲಾ ಹಿರಿಯರು, ಸತ್ತರಲ್ಲಾ ನಾಯಿ ಸಾವ !
ಸತ್ತವರ ಹೆಸರ ಪತ್ರವ ನೋಡಿದಡೆ (ಓದಿದಡೆ?)
ಅದೆತ್ತಣ ಮುಕ್ತಿಯೊ ಗುಹೇಶ್ವರಾ ? ॥೧೯೫॥

೮೯೦

ಆದಿಯ ಲಿಂಗ ನಿನ್ನಿಂದ ಎನಗಾಯಿತ್ತು.
ಅನಾದಿಯ ಜ್ಞಾನ ನಿನ್ನ ನೆನೆದಡೆ ಎನಗಾಯಿತ್ತು.
ನಿನ್ನ ಕೃಪೆಯಿಂದ ಪ್ರಾಣ ಲಿಂಗವೆಂದರಿದೆನೆಂಬುದ,
ನಿಮ್ಮ ಪ್ರಮಥರೆ ಬಲ್ಲರು.
ಗುಹೇಶ್ವರ ಸಾಕ್ಷಿಯಾಗಿ, ಸಂಗನಬಸವಣ್ಣ
ನಿನ್ನ ಪ್ರಸಾದದ ಶಿಶು ನಾನು ನೋಡಯ್ಯಾ. ॥೧೯೬॥

೮೯೧

ಆದಿಯ ಲಿಂಗವ ತೋರಿದ ಅನಿಮಿಷನ ಕಂಡೆನಯ್ಯಾ ಇಂದು.
ಕೃತಯುಗದ ಸ್ಕಂದನೆಂಬ ಗಣೇಶ್ವರನ ಕಂಡೆನಯ್ಯಾ ಇಂದು.
ತ್ರೇತಾಯುಗದ ನೀಲಲೋಹಿತನೆಂಬ ಗಣೇಶ್ವರನ ಕಂಡೆನಯ್ಯಾ ಇಂದು.
ದ್ವಾಪರಯುಗದ ವೃಷಭನೆಂಬ ಗಣೇಶ್ವರನ ಕಂಡೆನಯ್ಯಾ ಇಂದು.
ಕಲಿಯುಗದಲ್ಲಿ ಅನಿಮಿಷಬಸವನೆಂಬ ಗಣೇಶ್ವರನ ಕಂಡೆನಯ್ಯಾ ಇಂದು.
ಎನ್ನ ಕಂಡವರನೂ, ನಿನ್ನ ಕಂಡವರನೂ.
ಇಂದು ಕಂಡೆ ಕಾಣಾ ಗುಹೇಶ್ವರಾ. ॥೧೯೭॥

೮೯೨

ಆದಿಯ ಲಿಂಗವ ಮೇದಿನಿಗೆ ತಂದು,
ಮರ್ತ್ಯಲೋಕದಲ್ಲಿ ಮಹಾಮನೆಯ ಕಟ್ಟಿದನಯ್ಯಾ ಸಂಗನಬಸವಣ್ಣನು.
ಆ ಮನೆಯ ನೋಡಲೆಂದು ಹೋದಡೆ,
ಆ ಗೃಹ ಹೋಗದ ಮುನ್ನವೆ ಎನ್ನ ನುಂಗಿತ್ತಯ್ಯಾ !
ಅದಕ್ಕೆ ಕಂಭ ಒಂದು, ತೊಲೆ ಆರು, ಜಂತೆವಲಗೆ ಮೂವತ್ತಾರು
ಧರೆಯಾಕಾಶವ ಹೊದ್ದದ ಕೆಸರುಗಲ್ಲು
ಒಂಬತ್ತು ಬಾಗಿಲು, ಬಿಯ್ಯಗವಿಕ್ಕಿಹವು.
ಬೇರೊಂದು ಬಾಗಿಲು ಉರಿಯನುಗುಳುತಿರ್ಪುದು.

ಮುತ್ತಿನ ಕಂಭದ ಮೇಲುಕಟ್ಟಿನ ಮೇಲೆ ಮಾಣಿಕ್ಯದ ಶಿಖರಿ !
ಆ ಶಿಖರಿಯ ತುದಿಯಲ್ಲಿ ಬಿಳಿಯ ಹೊಂಗಳಸವಿಪ್ಪುದು.
ಅದು ಕಾಬವರಿಗೆ ಕಾಣಬಾರದು.
ಕಾಣಬಾರದವರಿಗೆ ಕಾಣಬಪ್ಪುದು.
ಅಲ್ಲಿ ಹತ್ತು ಮಂದಿ ಪರಿಚಾರಕರು ಎಡೆಯಾಡುತಿಪ್ಪರು.
ಇಬ್ಬರು ದಡಿಕಾರರು ಬಾಗಿಲ ಕಾಯ್ದಿಪ್ಪರು.
ಒಬ್ಬಾಕೆ ಎಡೆಯಾಡುತ್ತಿಪ್ಪಳು.
ಒಬ್ಬಾಕೆ ಲಿಂಗಾರ್ಚನೆಗೆ ನೀಡುತ್ತಿಪ್ಪಳು.
ಒಬ್ಬಾಕೆ ಸುಯಿಧಾನಂಗಳೆಲ್ಲವನು ಶೋಧಿಸಿ ತಂದುಕೊಡುತ್ತಿಪ್ಪಳು.
ಒಬ್ಬಾಕೆ ಉರಿಯಿಲ್ಲದಗ್ನಿಯಲಿ ಪಾಕವ ಮಾಡುತ್ತಿಪ್ಪಳು.
ಒಬ್ಬಾಕೆ ಲಿಂಗಜಂಗಮಕ್ಕೆ ಮಾಡಿ, ನೀಡಿ, ಊಡಿ, ಉಣಿಸಿ
ತೃಪ್ತಿಯ ಮಾಡುತ್ತಿಪ್ಪಳು –
ಒಂದಡ್ಡಣಿಗೆಯ ಮೇಲೆ,
ಐದು ಅಗಲೊಳಗೆ ಇಟ್ಟ ಬೋನವನು ಒಬ್ಬನುಂಡಡೆ,
ಪ್ರಮಥಗಣಂಗಳೆಲ್ಲರೂ ಆತನ ಒಕ್ಕುದ ಕೊಳಲೆಂದು ಬಂದು,
ಆ ಮನೆಯ ಹೊಕ್ಕು ನಿಶ್ಚಿಂತನಿವಾಸಿಗಳಾದರು.
ಗುಹೇಶ್ವರನ ಶರಣ ಸಂಗನಬಸವಣ್ಣನ ಮಹಾಮನೆಯ ಕಂಡು
ಧನ್ಯನಾದೆನು ಕಾಣಾ ಸಿದ್ಧರಾಮಯ್ಯಾ. ॥೯೮॥

೯೨

ಆದಿಯಲ್ಲಿ ಗುರುಬೀಜವಾದ ಪಿಂಡಕ್ಕೆ,
ಅನಾದಿಯೆಂಬುದನೊಬ್ಬರು ತಿಳುಹಲುಂಟೆ ?
ಆದಿ ಕಾಯ ಅನಾದಿ ಪ್ರಾಣವಾಗಿಪ್ಪ ಯೋಗವ ಭೇದಿಸಿ
ತನ್ನೊಳಗೆ ತಾನೆ ತಿಳಿದು ನೋಡಲು
'ಸೋಽಹಂ' ಎಂಬುದು ತಾನೆ ಸತ್ಯ ನೋಡಾ !
('ಕೋಽಹಂ' ಎಂಬುದು ತಾನಸತ್ಯ ನೋಡಾ?) ॥೯೯॥

೯೪

ಆದಿಯಲ್ಲಿ ನೀನೆ ಗುರುವಾದ ಕಾರಣ ನಿನ್ನಿಂದ ಹುಟ್ಟಿತ್ತು ಲಿಂಗ.
ಆದಿಯಲ್ಲಿ ನೀನೆ ಲಿಂಗವಾದ ಕಾರಣ ನಿನ್ನಿಂದ ಹುಟ್ಟಿತ್ತು ಜಂಗಮ.
ಆದಿಯಲ್ಲಿ ನೀನೆ ಜಂಗಮವಾದ ಕಾರಣ ನಿನ್ನಿಂದ ಹುಟ್ಟಿತ್ತು ಪ್ರಸಾದ.

ಆದಿಯಲ್ಲಿ ನೀನೆ ಪ್ರಸಾದಿಯಾದ ಕಾರಣ ನಿನ್ನಿಂದ ಹುಟ್ಟಿತ್ತು ಪಾದೋದಕ.
ಇಂತೀ–ಗುರು ಲಿಂಗ ಜಂಗಮ ಪ್ರಸಾದ ಪಾದೋದಕ ಸ್ವರೂಪ
ನೀನೆಯಾದ ಕಾರಣ;
ಜಂಗಮ ಪ್ರಾಣಿಯಾಗಿ ಸದಾಚಾರಿಯಾದೆ,
ಅದು ಕಾರಣ ನೀನೆ ಸರ್ವಾಚಾರಸಂಪನ್ನನಾಗಿ,
ಪೂರ್ವಾಚಾರಿ[ಯೂ] ನೀನೆಯಾದೆ.
[ಅದು] ಕಾರಣ, ಗುಹೇಶ್ವರಲಿಂಗದಲ್ಲಿ ಚಂದಯ್ಯಂಗೆ.
ಲಿಂಗದ ನಿಜವ ತಿಳುಹಾ ಸಂಗನಬಸವಣ್ಣಾ ! ॥೨೦೦॥

೮೯೫

ಆದಿಯಾಧಾರಮಂ ಮಾಡಿ. ಅಜಕೋಟಿ ಬ್ರಹ್ಮಾಂಡಂಗಳ ಮಾಡಿ
ಈರೇಳು ಭುವನಂಗಳಂ ಮಾಡಿ ಹರ ಲೀಲೆಯಾಡುವಲ್ಲಿ –
ಹರಿವಿರಿಂಚಿಗಳ ಸುರಾಸುರರ ಶಿರೋಮಾಲೆಯನಿಕ್ಕಿ ಕುಣಿದಾಡುವಲ್ಲಿ
ಪಾದ ರಸಾತಳಕ್ಕಿಳಿದು ಭುವನ ಜಲಮಯವಾದಲ್ಲಿ
ಹಸ್ತ ಮಕುಟ ತಾಗಿ ಸಕಲಲೋಕಂಗಳೆಲ್ಲವೂ ನಿರವಯಲಾದಲ್ಲಿ
ನಿಜದ ಬೆಳಗಿನ ಬೆಳಗಿನೊಳು 'ಸೋऽಹಂ' ಎನಲು,
ವಿಚಾರದಿಂದ ಘನಮನವಾದಂದು,
ಗುಹೇಶ್ವರಾ ನೀನೆ ಲಿಂಗ, ನಾನೆ ಜಂಗಮ, ಬಸವಣ್ಣನೇ ಭಕ್ತ ! ॥೨೦೧॥

೮೯೬

ಆದಿಯಾಧಾರವಿಲ್ಲದ ಆಗಮನಾಸ್ತಿಯಾಗಿಪ್ಪ
ಸಾಗಾರ (ಆಗರ?) ವಿರಹಿತನನಾರೂ ಅರಿಯರಲ್ಲಾ !
ದಶಮುಖವಾಣಿಕದೆಸಳಗಂಗಳು ಪರ್ಬಿಪಸರಿಸಿದುದನಾರೂ ಅರಿಯರಲ್ಲಾ !
ಪಿರಿದೊಂದು ವೃಕ್ಷವು ಅತಿಶಯದ ರೂಪಾಗಿ
ಪೃಥ್ವಿಗಿಂಬಾದುದನಾರೂ ಅರಿಯರಲ್ಲಾ !
ಅಂತರಂಗದ ಭುವನವ ಮುಟ್ಟಿ ನೋಡುತ್ತಿಪ್ಪ.
ಬೆಡಗಿನ ತಾವರೆಯ ಮಧ್ಯದ ತಾರಕಿಯನಾರೂ ಅರಿಯರಲ್ಲಾ !
ರವಿ–ಶಶಿಗಳಿಬ್ಬರು,
ನಯನ ನೋಟದ ಪುಷ್ಪಪರಿಮಳವಾಗಿರ್ದುದನಾರೂ ಅರಿಯರಲ್ಲಾ !
ಇಂತು ನಯನದಲ್ಲಿ ಸಂಭ್ರಮವಿಲ್ಲದ ರೂಪು, ಮಹತ್ವಾಗಿರ್ದುದನಾರೂ
ಅರಿಯರಲ್ಲಾ !

ಸಾಗರದೊಳಗಣ ಜ್ಯೋತಿಯಂತೆ,
ಗುಹೇಶ್ವರಲಿಂಗದೊಳಗೆ ಎನ್ನ ಪರಮಾರಾಧ್ಯ ಸಂಗನಬಸವಣ್ಣ[ನು].
ನಿಂದ ನಿಲವ ಉಪಮಿಸಬಾರದು ಕಾಣಾ ಸಿದ್ಧರಾಮಯ್ಯಾ. ॥೨೦೨॥

೮೯೭

ಆದಿಯಿಂದತ್ತತ್ತಲೆನಗೆ ನೀನೆ ಗುರುವಯ್ಯಾ.
ಅನಾದಿಯಿಂದತ್ತತ್ತಲೆನಗೆ ನೀನೆ ಗುರುವಯ್ಯಾ.
ಈ ಎರಡು ನಾಮ ಹುಟ್ಟದ ಮುನ್ನ
ನಿಮಗೆ ನಾನು ಶಿಷ್ಯನಯ್ಯಾ.
ಎನ್ನ ಭಾವಕಾಯದೊಳಗಣ ಭ್ರಮೆಯ ಕಳೆದು,
ಎನ್ನ ಜ್ಞಾನಕಾಯದೊಳಗಣ ಮರಹ ಕಳೆದು,
ಎನ್ನೊಳಗೆ ತಿಳಿವಿನ ಬಗೆಯ ತೋರುತ್ತ,
ಹೊರಗೆ ನುಡಿಯದಂತಿರ್ದಡೆ ಬಿಡೆನು ನೋಡಾ ನಿಮ್ಮ ಶ್ರೀಚರಣವನು.
ಮಾಡಿದಡೆ ಅಂತು ಮಹಾಪ್ರಸಾದವೆಂದು ಕೈಕೊಂಬೆ.
ಮಾಡದಿರ್ದಡೆ ನೀವೆ ನಾನಾಗಿ ಮಹಾಪ್ರಸಾದವೆಂದು ಕೈಕೊಂಬೆನು,
ಇಂತು ಆವತೆರದಿಂದಲಾದಡೂ
ಎನ್ನೊಡಲ ನಿಮ್ಮಲ್ಲಿ ಸವೆದು ಪಡೆವೆನು ನಿಮ್ಮ ಕರುಣವ
ಗುಹೇಶ್ವರಾ ಎನ್ನ ಇರವಿನ ಪರಿ ಇಂತುಟು ನೋಡಾ. ॥೨೦೩॥

೮೯೮

ಆದಿಯಿಲ್ಲದೆ, ಕರ್ತೃವಿಲ್ಲದೆ, ಕರ್ಮಂಗಳಿಲ್ಲದೆ
ನಿನ್ನಿಂದ ನೀನೇ ಸಗುಣನಯ್ಯಾ.
ನಿನ್ನ ಸ್ವಲೀಲೆವಿಡಿದಾಡಿ ನಿನ್ನಿಂದ ನೀನೇ ನಿರ್ಗುಣನಯ್ಯಾ.
ಅದೆಂತೆಂದಡೆ:
"ಅನಾದಿಸಿದ್ಧಸಂಸ್ಕಾರಃ ಕರ್ತೃಕರ್ಮವಿವರ್ಜಿತಃ
ಸ್ವಯಮೇವ ಭವೇದ್ದೇಹೇ ಸ್ವಯಮೇವ ವಿಲೀಯತೇ"
ಎಂದುದಾಗಿ,
ಗುಹೇಶ್ವರಾ, ನಿನ್ನ ಲೀಲೆಯ ಘನವ ನೀನೇ ಬಲ್ಲೆ. ॥೨೦೪॥

೮೯೯

ಆದಿವಿಡಿದು ಬಹಾತ ಭಕ್ತನಲ್ಲ, ಅನಾದಿವಿಡಿದು ಬಹಾತ ಮಾಹೇಶ್ವರನಲ್ಲ,
ಸ್ಥಲವಿಡಿದು ಬಹಾತ ಪ್ರಸಾದಿಯಲ್ಲ.

ಇಷ್ಟಲಿಂಗದಲ್ಲಿ ಪ್ರಸಾದವ ಕೊಂಬಾತ ಪ್ರಾಣಲಿಂಗಿಯಲ್ಲ,
ಲಿಂಗವಿಡಿದು ಬಹಾತ ಶರಣನಲ್ಲ,
ಭಿನ್ನಭಾವವಿಡಿದು ಬಹಾತ ಐಕ್ಯನಲ್ಲ,
ಶೂನ್ಯಕಾಯವ ನಿಶ್ಶೂನ್ಯಂಗಿಕ್ಕಿ, ಪ್ರಾಣಲಿಂಗಪ್ರಸಾದವ ಕೊಳಬಲ್ಲನಾಗಿ
ಗುಹೇಶ್ವರಲಿಂಗದಲ್ಲಿ ಚೆನ್ನಬಸವಣ್ಣಂಗೆ ನಮೋ ನಮೋ ಎಂಬೆನು. ॥೨೦೫॥

೬೦೦

ಆದಿಶಕ್ತಿ ಅನಾದಿಶಕ್ತಿಯೆಂಬರು ಅದನಾರು ಬಲ್ಲರಯ್ಯಾ ?
'ಆದಿ' ಎಂದಡೆ ಕುರುಹಿಂಗೆ ಬಂದಿತ್ತು.
'ಅನಾದಿ' ಎಂದಡೆ ನಾಮಕ್ಕೆ ಬಂದಿತ್ತು.
ಆದಿಯೂ ಅಲ್ಲ ಅನಾದಿಯೂ ಅಲ್ಲ,
ನಾಮವಿಲ್ಲದ ಸೀಮೆಯಿಲ್ಲದ ನಿಜಭಕ್ತಿಯೆ
ಚಿಚ್ಛಕ್ತಿಯಾಯಿತ್ತು ನೋಡಾ.
ಅಂತರಂಗದ ಪ್ರಭೆ ಬಹಿರಂಗವೆಲ್ಲಾ ತಾನೆಯಾಗಿ
ಗುಹೇಶ್ವರಲಿಂಗದಲ್ಲಿ ಸಂದಿಲ್ಲದಿಪ್ಪ
ಮಹಾದೇವಿಯಕ್ಕನ ಶ್ರೀಪಾದಕ್ಕೆ ನಮೋ ನಮೋ ಎಂಬೆನು. ॥೨೦೬॥

೬೦೧

ಆದಿ ಸ್ವಯಂಭುವಿಲ್ಲದ ಮುನ್ನ, ಸಂಗನಿಸ್ಸಂಗವಿಲ್ಲದ ಮುನ್ನ,
ನಕ್ಷತ್ರಗ್ರಹಂಗಳಿಲ್ಲದ ಮುನ್ನ, ಯೋಗ ಕರಣಂಗಳಿಲ್ಲದ ಮುನ್ನ,
ಖೇಚರ ಭೂಚರರಿಲ್ಲದ ಮುನ್ನ, ಆರಾರೂ ಇಲ್ಲದ ಮುನ್ನ,
ಆಕಾಶ ಮಾರುತರಿಲ್ಲದ ಮುನ್ನ, ಅಂಬುಧಿ ಕಮಠರಿಲ್ಲದ ಮುನ್ನ --
ಹರಿಬ್ರಹ್ಮಾದಿಗಳಾರ ನಿಲವಿಲ್ಲದ ಮುನ್ನ
ಹಿಮಕರದಿನಕರ ಸುಳುಹಿಲ್ಲದ ಮುನ್ನ –
ಹಿಂದಿಲ್ಲ ಮುಂದಿಲ್ಲ ಒಂದೂ ಇಲ್ಲದ ಮುನ್ನ,
ಗುಹೇಶ್ವರನಿರ್ದ ತನ್ನ ತಾನರಿಯದಂತೆ. ॥೨೦೭॥

೬೦೨

ಅನು ನೀನೆಂದ ಬಳಿಕ, ಮತ್ತೆ ಏನೂ ಇಲ್ಲ
ಇಲ್ಲಾದುದಿಲ್ಲಾದುದೆಂತಿಪ್ಪುದೊ ?
ತನು ಮರೆದು ಘನವ ಬೆರೆದಡೆ,
ಭವರಹಿತನು ಗುಹೇಶ್ವರಯ್ಯ ತಾನೆ. ॥೨೦೮॥

೬೦೩

ಆ ಮೂಲಮಂತ್ರಮೂರ್ತಿಯ ನಿಲುಕಡೆಯ ಕೇಳಿರಯ್ಯ ಶರಣಗಣಂಗಳೆ;
ಬ್ರಹ್ಮಾಂಡ ಮಧ್ಯದಲ್ಲಿ ಪಿಂಡಾಕೃತಿಯ ಧರಿಸಿ, ಆ ಪೂರ್ವಾಶ್ರಯ ಸ್ವರೂಪವಾದ
ಪಿಂಡಬ್ರಹ್ಮಾಂಡಗಳ ಜೀವನವರ್ತನ–
ದುರ್ಮಾರ್ಗ–ದುರ್ನಡತೆ–ದುರಾಚಾರ–ದುರ್ಗುಣಂಗಳ ತ್ಯಜಿಸಿ,
ಗುರು ಲಿಂಗ ಜಂಗಮ ಭಕ್ತ ಮಹೇಶ್ವರ ಪ್ರಸಾದಿ ಪ್ರಾಣಲಿಂಗಿ,
ಶರಣ ಐಕ್ಯಗಣಂಗಳಲ್ಲಿ
ಒಪ್ಪುತಿರ್ಪರು ನೋಡಾ,–
ನಿರವಯ ಶೂನ್ಯಲಿಂಗಮೂರ್ತಿ ಗುಹೇಶ್ವರಲಿಂಗವು ಚೆನ್ನಬಸವಣ್ಣ. ॥೨೯೯॥

೬೦೪

ಆಯತದಲ್ಲಿ ಪೂರ್ವಾಚಾರಿಯ ಕಂಡೆ.
ಸ್ವಾಯತದಲ್ಲಿ ಪೂರ್ವಾಚಾರಿಯ ಕಂಡೆ.
ಸನ್ನಹಿತದಲ್ಲಿ ಪೂರ್ವಾಚಾರಿಯ ಕಂಡೆ.
ಗುಹೇಶ್ವರಲಿಂಗದಲ್ಲಿ ಪೂರ್ವಾಚಾರಿ ಸಂಗನಬಸವಣ್ಣನ,
ಶ್ರೀಪಾದಕ್ಕೆ ನಮೋ ನಮೋ ಎಂಬೆನು. ॥೩೦೦॥

೬೦೫

ಆಯತಲಿಂಗವಿಡಿದು ಸ್ವಾಯತಲಿಂಗವ ಕಾಣಬೇಕು ಸಿದ್ಧರಾಮಯ್ಯಾ.
ಸ್ವಾಯತಲಿಂಗವಿಡಿದು ಸನ್ನಹಿತಲಿಂಗವ ಕಾಣಬೇಕು ಸಿದ್ಧರಾಮಯ್ಯಾ.
ಸನ್ನಹಿತಲಿಂಗವಿಡಿದು ಮಹಾಲಿಂಗವ ಕಾಣಬೇಕು ಸಿದ್ಧರಾಮಯ್ಯಾ.
ಮಹಾಲಿಂಗವಿಡಿದು ಜಂಗಮಲಿಂಗವ ಕಾಣಬೇಕು ಸಿದ್ಧರಾಮಯ್ಯಾ.
ಜಂಗಮಲಿಂಗವಿಡಿದು ಶಿವಲಿಂಗವ ಕಾಣಬೇಕು ಸಿದ್ಧರಾಮಯ್ಯಾ.
ಶಿವಲಿಂಗವಿಡಿದು ಗುರುಲಿಂಗವ ಕಾಣಬೇಕು ಸಿದ್ಧರಾಮಯ್ಯಾ.
ಗುರುಲಿಂಗವಿಡಿದು ಆಚಾರಲಿಂಗವ ಕಾಣಬೇಕು ಸಿದ್ಧರಾಮಯ್ಯಾ–
ಇಂತೀ ಆಚಾರಲಿಂಗವಿಡಿದು ಷಟ್‌ಸ್ಥಲದ ಆದಿ ಮಧ್ಯಾಂತವರಿದು. ಸಂಬಂಧಿಸಿ.
ಒಂದು ಮಾಡಿಕೊಂಡಿಪ್ಪ ಈ ಕರಸ್ಥಲದನುವ.
ಗುಹೇಶ್ವರನ ಶರಣ ಸಂಗನಬಸವಣ್ಣ ಬಲ್ಲ.
ಬೆಸಗೊಂಬ ಬಾರಾ ಸಿದ್ಧರಾಮಯ್ಯಾ. ॥೩೦೧॥

೬೦೬

ಆಯತ ಸ್ವಾಯತ ಸನ್ನಹಿತನಾಗಿ.
ಆರಾಧ್ಯಲಿಂಗದಲ್ಲಿ ಅನುಭಾವಿಯಾಗಿಪ್ಪನು ಬಸವಣ್ಣನು.

ಜಂಗಮಲಿಂಗ ಪ್ರಾಣಿಯಾಗಿ ನಿಷ್ಪ್ರಾಣವಾಗಿಪ್ಪನು ಬಸವಣ್ಣನು.
ಗುಹೇಶ್ವರಲಿಂಗದಲ್ಲಿ,
ಸಂಗನಬಸವಣ್ಣನ ಆಚಾರದ ಪರಿ ನಿನಗಲ್ಲದೆ ಅರಿಯಬಾರದು.
ಎನಗೊಮ್ಮೆ ತಿಳುಹಿಕೊಡಾ ಚೆನ್ನಬಸವಣ್ಣಾ. ॥೨೧೨॥

೯೦೭

ಆಯಿತ್ತು ಬಸವಾ ನಿನ್ನಿಂದ ಗುರುಸ್ವಾಯತವೆನಗೆ.
ಆಯಿತ್ತು ಬಸವಾ ನಿನ್ನಿಂದ ಲಿಂಗಸ್ವಾಯತವೆನಗೆ.
ಆಯಿತ್ತು ಬಸವಾ ನಿನ್ನಿಂದ ಜಂಗಮಸ್ವಾಯತವೆನಗೆ.
ಆಯಿತ್ತು ಬಸವಾ ನಿನ್ನಿಂದ ಪ್ರಸಾದಸ್ವಾಯತವೆನಗೆ.
ಇಂತೀ ಚತುರ್ವಿಧ ಸ್ವಾಯತವನು ನೀನೆ ಮಾಡಿದೆಯಾಗಿ
ನಮ್ಮ ಗುಹೇಶ್ವರಲಿಂಗಕ್ಕೆ ವಿಳಾಸವಾದೆಯಲ್ಲಾ ಸಂಗನಬಸವಣ್ಣಾ. ॥೨೧೩॥

೯೦೮

ಆರಾಧಿಸಿ ವಿರೋಧಿಸುವರೆ ? ಪೂಜಿಸಿ ಪೂಜೆಯ ಮರೆಯುವರೆ ?
ಜಂಗಮಲಿಂಗವೆಂದರಿದವರು ಸಂಚ ತಪ್ಪುವರೆ ?
ಗಾಳಿಯೂ ಗಂಧವೂ ಕೂಡಿದಂತೆ ಜಗದೊಳಗೆ ಇದೆ !
ಕೀರ್ತಿವಾರ್ತೆಯ ಹಡೆದೆಯಲ್ಲಾ ಬಸವಣ್ಣಾ.
ನಿನ್ನ ಶಿಶುವಿನೊಡತಣ ತೆರಹುಮರಹ ಪ್ರಮಥರು ಮೆಚ್ಚುವರೆ ?
ತಿಳಿದು ನೋಡುವಡೆ ಗುಹೇಶ್ವರನ ಶರಣ ಅಲ್ಲಯ್ಯಂಗೆ
ನೀನು ಪರಮಾರಾಧ್ಯ ಕಾಣಾ ಸಂಗನಬಸವಣ್ಣ. ॥೨೧೪॥

೯೦೯

ಆರಾರ ನೇಮಕ್ಕೆ ಸಂದಿತ್ತು,
ಇಚ್ಛಾಭೋಜನಕ್ಕೆ ಕೃತ್ಯವಾಯಿತ್ತು.
ಮನಘನದೊದಗ ಕಂಡೆಯಾ ಸಂಗನಬಸವಣ್ಣಾ,
ಗುಹೇಶ್ವರಲಿಂಗಕ್ಕೆ ಆಶ್ಚರ್ಯವಾಯಿತ್ತು. ॥೨೧೫॥

೯೧೦

ಆರಾರ ಭಾವಕ್ಕೆ ತೋರಿದಂತೆ ಆ ಕುಳಕ್ಕೆ ಸುಖವಾಗಿಪ್ಪನು.
ಹಿಡಿದ ವ್ರತನೇಮಂಗಳಲ್ಲಿ ಬಿಡುಗಡೆ ಇಲ್ಲದಿರಬೇಕು.

ತಾ ಮಾಡುವ ನಿತ್ಯನೇಮಂಗಳಲ್ಲಿ ಭಾವಶುದ್ಧವಾಗಿಪ್ಪಡೆ
ಗುಹೇಶ್ವರಲಿಂಗಕ್ಕೆ ಅನ್ಯಭಿನ್ನವಿಲ್ಲ ಮಡಿವಾಳ ಮಾಚಯ್ಯಾ. ॥೨೧೬॥

೬೧೧

ಆರು ಅಂಕಣದೊಳಗಾರು ದರುಶನ ಪೂಜೆ,
ಆರೂಢರೂಢಾದಿಯೋಗಿಗಳಿರುತ್ತಿರಲು,
ಆರಾರಿಂದತ್ತತ್ತ ಮೀರಿ ತೋರುವ ಸ್ವಯಂಜ್ಯೋತಿ ಇರಲು,
ಬೇರೆಯರಸಲುಂಟೆ ಶಿವಯೋಗವು ?
ಆರು ಅಂಕಣದೊಳಗೆ ಆರು ಮಂದಿಯ
ಸಂದಣಿಯ ಓಲಗದ ಸಡಗರವೆಂದು
ಆರೂಢ ಯೋಗಿಗಳದನೆಣಿಕೆಗೊಳರು.
ಮೂರು ಮನೆಯ ಮತ್ತೆ ದಾಳಿಗೊಳುವ ಕಾರಣಿಕರವಲ್ಲವಾಗಿ
ಮೀರಿ ಒಂಬತ್ತು ಗೊಪೆಯೊಳು
ಲಯ ಗಮನ ಸ್ಥಿತ್ಯರ್ಥಂಗಳ ಹಂಗಿಲ್ಲದ ಹಂಗಿನಲ್ಲಿ
ನೀನು ನಿನ್ನಲ್ಲಿ ಪತಂಗನ್ಯಾಯದಂತೆ
ಗುಹೇಶ್ವರನೊಳೊಂದು ಕಂಡಾ. ॥೨೧೭॥

೬೧೨

ಆರು ಚಕ್ರದಲ್ಲಿ ಅರಿದಿಹೆನೆಂಬ ಅಜ್ಞಾನ ಜಡರುಗಳು ನೀವು ಕೇಳಿರೊ !
ಅದೆಂತೆಂದಡೆ :
ಆಧಾರಚಕ್ರ ಪೃಥ್ವಿ ಸಂಬಂಧ, ಅಲ್ಲಿಗೆ ಬ್ರಹ್ಮನಧಿದೇವತೆ,
ಆಚಾರ ಲಿಂಗವ ಪಿಡಿದು ಯೋಗಿಯಾಗಿ ಸುಳಿದ !
ಸ್ವಾದಿಷ್ಠಾನ ಚಕ್ರ ಅಪ್ಪುವಿನ ಸಂಬಂಧ, ಅಲ್ಲಿಗೆ ವಿಷ್ಣು ಅಧಿದೇವತೆ,
ಗುರುಲಿಂಗವ ಪಿಡಿದು ಜೋಗಿಯಾಗಿ ಸುಳಿದ !
ಮಣಿಪೂರಕಚಕ್ರ ಅಗ್ನಿಯ ಸಂಬಂಧ, ಅಲ್ಲಿಗೆ ರುದ್ರನಧಿದೇವತೆ,
ಶಿವಲಿಂಗವ ಪಿಡಿದು ಶ್ರವಣನಾಗಿ ಸುಳಿದ !
ಅನಾಹತಚಕ್ರ ವಾಯು ಸಂಬಂಧ, ಅಲ್ಲಿಗೆ ಈಶ್ವರನಧಿದೇವತೆ,
ಜಂಗಮಲಿಂಗವ ಪಿಡಿದು ಸನ್ಯಾಸಿಯಾಗಿ ಸುಳಿದ !
ವಿಶುದ್ಧಿ ಚಕ್ರ ಆಕಾಶ ಸಂಬಂಧ, ಅಲ್ಲಿಗೆ ಸದಾಶಿವನಧಿದೇವತೆ,
ಪ್ರಸಾದಲಿಂಗವ ಪಿಡಿದು ಕಾಳಾಮುಖಿಯಾಗಿ ಸುಳಿದ !
ಆಜ್ಞಾಚಕ್ರ ಪರತತ್ತ್ವ ಸಂಬಂಧ ಅಲ್ಲಿಗೆ ಪರಶಿವನಧಿದೇವತೆ,
ಮಹಾಲಿಂಗವ ಪಿಡಿದು ಪಾಶುಪತಿಯಾಗಿ ಸುಳಿದ !
ಇಂತೀ ಆರುದರುಶನಂಗಳು ಬಂದಡೆ ಅಂಗಳವ ಹೋಗಲೀಶರಿ !

ಆ ಲಿಂಗ ನಿಮಗೆಂತಪ್ಪವು ?
ಇದು ಕಾರಣ, ಮುಂದಿರ್ದ ಗುರುಲಿಂಗಜಂಗಮದ ತ್ರಿವಿಧ ಸಂಬಂಧವನರಿಯದೆ
ಷಟ್ಸ್ಥಲದಲ್ಲಿ ತೃಪ್ತರಾದೆವೆಂಬ ಭ್ರಷ್ಟರ ನೋಡಾ ಗುಹೇಶ್ವರಾ ! ॥೨೧೮॥

೬೧೩

ಆರು ಚಕ್ರದೊಳಗೆ ಆರುಭೂತಂಗಳೇರಿಪ್ಪವಯ್ಯಾ
ಅವರೊಳಗೆ ಬ್ರಹ್ಮ ವಿಷ್ಣು ರುದ್ರು ಈಶ್ವರ ಸದಾಶಿವ ಆತ್ಮ ತತ್ವವೆಂಬ
ಆರು ಅಧಿದೇವತೆಗಳಿಪ್ಪವಯ್ಯಾ.
ಇಂತಪ್ಪ ಷಟ್ಕರ್ಮ ಸಾದಾಖ್ಯರ
ಹಾನಿ ಮಾಡಿ ದಾಟುವರನೆ ಭಕ್ತಜಂಗಮವೆಂಬೆನು ಕಾಣಾ ಗುಹೇಶ್ವರಾ. ॥೨೧೯॥

೬೧೪

ಆರು ದರುಶನ ಅನಾಚಾರವ ನಡೆದವು,
ಸುರೆಯ ಕುಡಿದವು, ಮಾಂಸವ ತಿಂದವು.
ಆರು ದರುಶನಕ್ಕೆ ಅನಾಚಾರವಾದುದೆಂದು
ನಾನು ಗುರುವಾದೆ ಕಾಣಾ ಗುಹೇಶ್ವರಾ. ॥೨೨೦॥

೬೧೫

ಆರುಲಿಂಗದಲ್ಲಿ ಅರಿದಿಹೆನೆಂಬ ಆರುಹುಗೇಡಿಗಳು ನೀವು ಕೇಳಿರೊ !
ಆರುಲಿಂಗ ನಿಮಗೆಲ್ಲಿಹವು ?
ಅದೆಂತೆಂದಡೆ: ಆಚಾರಲಿಂಗ ಬ್ರಹ್ಮಂಗೆ ಸಂಬಂಧ,
ಗುರುಲಿಂಗ ವಿಷ್ಣುವಿಂಗೆ ಸಂಬಂಧ,
ಶಿವಲಿಂಗ ರುದ್ರಂಗೆ ಸಂಬಂಧ,
ಜಂಗಮಲಿಂಗ ಈಶ್ವರಂಗೆ ಸಂಬಂಧ,
ಪ್ರಸಾದಲಿಂಗ ಸದಾಶಿವಂಗೆ ಸಂಬಂಧ,
ಮಹಾಲಿಂಗ ಪರಶಿವಂಗೆ ಸಂಬಂಧ,
ಇಂತಾರುಲಿಂಗ ಆರುದರುಶನಕ್ಕೆ ಸಂಬಂಧ.
ನಿಮ್ಮ ಸಂಬಂಧವ ನೀವು ಬಲ್ಲಿರೆ ಹೇಳಿರೊ ! ಅರಿಯದಿರ್ದಡೆ ಕೇಳಿರೊ !
ಗುರುಲಿಂಗ ಜಂಗಮವೆಂಬ ತ್ರಿವಿಧ ಸಂಬಂಧವ ತಿಳಿದು !
ಆರು ಪರಿಯ ಶಿಲೆಯಂ ಮೆಟ್ಟಿ ! ಮೂರುಬಾಗಿಲ ತೆರೆದು !
ಶ್ರೀ ಗುರುವಿನ ಪ್ರಸಾದವ ಸವಿದು ! ಮುಂದಿರ್ದ ಲಿಂಗಸಂಗವ ಮಾಡಿ !
ಆ ಪ್ರಥಮಶಿವನೆಂಬ ಜಂಗಮವ ನೋಡುತ್ತಾ ನೋಡುತ್ತಾ ನಿಬ್ಬೆರಗಾಗಬೇಕು !

ಇದು ಕಾರಣ ಆರುಮೂರುಗಳೆಂಬ ಮರವೆಯ ಹರಿದು,
ತಟ್ಟುಮುಟ್ಟುಗಳೆಂಬ ಭ್ರಮೆಯ ಜರೆದು ! ಅಂಗಲಿಂಗವೆಂಬ ದ್ವಂದ್ವವ ಹಿಂಗಿ
ನಿಸ್ಸಂಗಿಯಾಗಿರ್ದೆನಯ್ಯಾ ಗುಹೇಶ್ವರಾ ! ॥೨೨೧॥

೯೧೬

ಆರುಸ್ಥಲದಲ್ಲಿ ಅರಿತಿಹೆನೆಂದು
ಸಹಭೋಜನದಲ್ಲಿ ಉಂಬ ಅಣ್ಣಗಳು ನೀವು ಕೇಳಿರೊ !
ಅಂಗದ ಮೇಲೆ ಲಿಂಗಸಂಬಂಧಿಯಾದಡೇನಯ್ಯ,
ಆ ಲಿಂಗವ ತನ್ನ ಪ್ರಾಣಕ್ಕೆ ಅವಧರಿಸದನ್ನಕ್ಕ !
ಆ ಇಷ್ಟಲಿಂಗಕ್ಕೆ ಅಷ್ಟವಿಧಾರ್ಚನೆ ಷೋಡಶೋಪಚಾರ
ಬಾಹ್ಯಕ್ರೀಯ ಮಾಡಿದಡೇನಯ್ಯ ನೈಷ್ಠೆ ಇಲ್ಲದನ್ನಕ್ಕ
ಅಷ್ಟಮದಂಗಳ ನಷ್ಟವಮಾಡಿ ಪಂಚೇಂದ್ರಿಯಂಗಳ ಲಿಂಗಮುಖವ ಮಾಡಿ
ದೇಹೇಂದ್ರಿಯ ಮನ ಪ್ರಾಣಾದಿಗಳ ಪ್ರಕೃತಿಯನಳಿದು !
ಇಷ್ಟ ಪ್ರಾಣ ಭಾವವೆಂಬ ತ್ರಿವಿಧ ಲಿಂಗಕ್ಕೆ
ರೂಪು ರುಚಿ ತೃಪ್ತಿಯನೀವ ವರ್ಮಾದಿವರ್ಮಂಗಳ ಭೇದವನರಿಯದೆ !
ಕರಸ್ಥಲದಲ್ಲಿ ಲಿಂಗವಿಡಿದು ಸಹಭೋಜನವೆಂದು ಒಂದಾಗಿ ಉಂಡು
ತಮ್ಮ ಒಡಲ ಹೊರೆವ ಲಿಂಗದ್ರೋಹಿಗಳ ನೋಡಿ ನಗುತ್ತಿರ್ದೆನಯ್ಯಾ
ಗುಹೇಶ್ವರಾ. ॥೨೨೨॥

೯೧೭

ಆಲಿಕಲ್ಲ ನಡುವೆ ಆರಯ್ಯಾ ಅಗ್ನಿಯನಿರಿಸಿದವರು ?
ಅದು ನಂದದೆ ಉರಿಯದೆ ನಿಂದ ಪರಿಯ ನೋಡಾ !
ಮನಪವನಗಳ ಅಡುಗಬ್ಬನಿಕ್ಕಿ,
ಅಗ್ನಿಯ ಪಟುಮಾಡಬಲ್ಲವರನೊಬ್ಬರನೂ ಕಾಣೆ !
ಹಸಿಯಡಗನೆ ಹಿಡಿದು ಹಸಿದು ಸತ್ತರು.
ಗುಹೇಶ್ವರಲಿಂಗದಲ್ಲಿ ಪ್ರಾಣಲಿಂಗಿಗಳಪೂರ್ವ ! ॥೨೨೩॥

೯೧೮

ಆವ ಕಾಯಕವಾದಡೂ ಒಂದೇ ಕಾಯಕವಯ್ಯಾ.
ಆವ ವ್ರತವಾದಡೂ ಒಂದೇ ವ್ರತವಯ್ಯಾ.
ಆಯ ತಪ್ಪಿದಡೆ ಸಾವಿಲ್ಲ; ವ್ರತ ತಪ್ಪಿದಡೆ ಕೂಡಲಿಲ್ಲ.
ಕಾಕಪಿಕದಂತೆ ಎಡೆಯಾಡಲು ನಾಯಕನರಕ ಗುಹೇಶ್ವರ. ॥೨೨೪॥

೬೧೯

ಆವ ಜಾತಿಯಾದಡೂ ಆಗಲಿ;
ಪುರಾತನ ಚಾರಿತ್ರದಲ್ಲಿ ನಡೆದು,
ಗುರುಲಿಂಗಜಂಗಮಕ್ಕೆ ಅರ್ಥಪ್ರಾಣಾಭಿಮಾನಮಂ ಕೊಟ್ಟು,
ಅಹಂಕಾರವಳಿದಿಹಂತಹ ಮಹಾತ್ಮರ
ಬಾಯ ತಂಬುಲವ ಮೆಲುವೆ, ಬೀಳುಡಿಗೆಯ ಹೊದಿವೆ.
ಅವರ ಪಾದರಕ್ಷೆಗಳೆರಡನೂ,
ಮಂಡೆಯ ಮೇಲೆ ಹೊತ್ತುಕೊಂಡು ಬದುಕುವೆನಯ್ಯಾ.
ಆ ಗಣಂಗಳ ದಾಸನ ದಾಸ ನಾನು,
ಜನ್ಮ ಜನ್ಮದಲ್ಲಿ ಆಗುವೆ ಕಾಣಾ ಗುಹೇಶ್ವರಾ. ॥೨೨೫॥

೬೨೦

ಆವನಾದಡೇನಯ್ಯಾ ಮಾನವನಪ್ಪುದು ಅರಿದಯ್ಯಾ.
ಮಾನವನಾಗಿ ಕಿಂಚಿನ್ಮಾತ್ರ ಶಿವಜ್ಞಾನವಿಲ್ಲದಿದ್ದಡೆ
ಶ್ವಾನ ಶರೀರವ ಹೊರೆದಂತೆ.
ಅವರನರಿದಡೆ ಸುಖವಿಲ್ಲ ಮರೆದಡೆ ದುಃಖವಿಲ್ಲ.
ಬದುಕಿದಡೆ ಆಗಿಲ್ಲ ಸತ್ತಡೆ ಚೇಗಿಲ್ಲ.
'ಏನೋ' ಎಂಬ ಸಂದೇಹವಿಲ್ಲ. ॥೨೨೬॥

೬೨೧

ಆ ಶಿಷ್ಯನ ಕರಣದ ಮೇಲಣ ಪೂರ್ವಾಶ್ರಯವ ಕಳೆದೆವೆಂದು
ಹೂಸಿ ಹುಂಡನ ಮಾಡಿ ಗುರುವಿನ ಕೈ ಮುಟ್ಟೆ
ಹೋಯಿತ್ತೆಂಬ ಸಂದಣಿಯಲ್ಲಿ ಹೋಗದು ನಿಲ್ಲು.
ಪಂಚೇಂದ್ರಿಯದ ಮೇಲಣ ಇಂದ್ರಿಯಲಿಕ್ತವ ತೊಡೆದು,
ಲಿಂಗಲಿಕ್ತವ ಮಾಡುವಡೆ ಶಿಷ್ಯನ ಕೈಯಲಲ್ಲದೆ,
ಗುರವಿನ ಕೈಯಲಾಗದು ನಿಲ್ಲು.
ಪಂಚೇಂದ್ರಿಯ ಪ್ರಾಣ ಸಂಯೋಗದಲ್ಲಿ ಭವಿಗೆ ಮಾಡಿದ ಬೋನವನು
ಭಕ್ತನ ಕಾಣಲೀಯದೆ ಮಾಡುವುದು ಸಯಿದಾನ.
ಲಿಂಗವಿಲ್ಲದ ಗುರು, ಗುರುವಿಲ್ಲದ ಶಿಷ್ಯ,
ಒಂದಕ್ಕೊಂದಿಲ್ಲದ ಗುಹೇಶ್ವರ ನಿಮ್ಮ ಶರಣನ ನಿಲವ
ಚೆನ್ನಬಸವಣ್ಣ ಬಲ್ಲನು. ॥೨೨೭॥

೯೨೨

ಆಹಾ ಮನವೆ, ಮರೆದೆಯಲ್ಲಾ ನಿನ್ನ ಪೂರ್ವಾಪರವ,
ಘನ ಮನದೊಳಡಗಿ, ಆ ಮನ ಲಿಂಗದೊಳಡಗಿ,
ಆ ಲಿಂಗವೆನ್ನ ಕರಸ್ಥಳಕ್ಕೆ ಬಂದ ಬಳಿಕ
ಅಳಿಯಿತ್ತು ಅಗಲಿತ್ತು' ಎಂಬ ಭಾವಭ್ರಾಂತಿ ಇದೇನೊ ?
ಜನನವಿಲ್ಲದ ಘನಕ್ಕೆ ಮರಣವುಂಟೆ ?
ತೆರಹಿಲ್ಲದ ನಿಜವು ತನ್ನಲ್ಲಿ ತಾನು ವೇದ್ಯವಾಗಿಪ್ಪುದಲ್ಲದೆ
ಇದಿರಿಟ್ಟು ತೋರದೆಂಬ ಅಜ್ಞಾನವಿದೇನೊ ?
'ನೀ' 'ನಾ' ಎಂಬುದು ಮಾದು.
'ತಾನೆ' ಆಗೆ ಸಾಧ್ಯವಾಯಿತ್ತು ! ಇದೇನೆಂಬೆ ಗುಹೇಶ್ವರಾ. ॥೨೨೮॥

೯೨೩

ಇಂತೀ ಮರ್ತ್ಯಲೋಕದ ಮಹಾಗಣಂಗಳು
ಅನಂತ ಪರೀಕ್ಷಣೆಯಿಂದ ಲಕ್ಷಣಾಲಕ್ಷಣಂಗಳಿಂದ ವಿಚಾರಿಸಿ
ಮಾರ್ಗಕ್ರಿಯೆವಿಡಿದು ಭಕ್ತಗಣ ಮಧ್ಯದಲ್ಲಿ ಸಾಕಾರಕಂಥೆಯ ನಡೆನುಡಿಗಳ.
ಪರಶಿವ ಗುರುಲಿಂಗಜಂಗಮಕ್ಕೆ ಸಮರ್ಪಿಸಿ
ನಿರ್ಮಾಲ್ಯವಾದ ಪುಷ್ಪವ
ಮಾರ್ಗಕ್ರಿಯಾಸ್ವರೂಪ ಸಮಾಧಿಯಲ್ಲಿ ಬಿಟ್ಟು
ನಿರವಯವಾದರು ನೋಡ !
ಇಂತು ಮಾರ್ಗಾಚರಣೆಯನರಿದು ಅದರಲ್ಲಿ ಸಂತೃಪ್ತರಾಗಿ
ಅದರಿಂದ ಮೀರಿತೋರುವ ಮೀರಿದ ಕ್ರಿಯಾಚರಣೆಯನರಿದು
ಇದ್ದು ಇಲ್ಲದಂತೆ, ಹೊದ್ದಿ ಹೊದ್ದದಂತೆ ನಿರಾಕಾರಕಂಥೆಯ ಪರಿಮಳ
ನಡೆನುಡಿಗಳ
ನಿರಾಕಾರ ಪರಶಿವ ಗುರುಲಿಂಗಜಂಗಮಕ್ಕೆ ಸಮರ್ಪಿಸಿ
ನಿರ್ಮಾಲ್ಯವಾದ ಪುಷ್ಪವ
ಮೀರಿದ ಕ್ರಿಯಾಸ್ವರೂಪ ಸಮಾಧಿಯಲ್ಲಿ ಬಿಟ್ಟು
ನಿರವಯ ನಿರಂಜನರಾದರು ನೋಡ !
ಇಂತು ಮಾರ್ಗಕ್ರಿ[ಯೆ]ಯ ಮೀರಿದ ಕ್ರಿ[ಯೆ]ಯ
ನಡೆ–ನುಡಿ–ಪರಿಣಾಮ–ತೃಪ್ತಿಯಲ್ಲಿ ತಾವೆ ತಾವಾಗಿರ್ಪರು ನೋಡ !
ಗುಹೇಶ್ವರಲಿಂಗಪ್ರಭುವೆಂಬ ನಾಮರೂಪುಕ್ರಿಯವಳಿದು
ಸಂಗನಬಸವಣ್ಣನ ಬೆಳಗಿನೊಳಗೆ
ಮಹಾಬಯಲಾದರು ನೋಡ ! ॥೨೨೯॥

೯೨೪

ಇಂದು ನಾಳೆ ಮುಕ್ತಿಯ ಪಡೆವೆನೆಂಬ ಶಿಷ್ಯಂಗೆ
ಮುಂದಳ ಮುಕ್ತಿಯ ತೋರಿಹೆನೆಂಬ ಗುರುಗಳ ನೋಡಿರೆ !
ಹೋಮ, ನೇಮ, ಜಪ, ತಪಗಳ ಮಾಡಿ ತಾನುಂಡು
ಫಲವುಂಟೆಂದ ಗುರು ಹುಸಿದು ಸತ್ತ, ಶಿಷ್ಯ ಹಸಿದು ಸತ್ತ.
ಹಿಂದಣ ಕಥೆಯ ಹೇಳುವಾತ ಹೆಡ್ಡ, ಮುಂದಣ ಕಥೆಯ ಹೇಳುವಾತ ಮೂಢ,
ಇಂದಿನ ಘನವ ಹೇಳುವಾತನೆ ಹಿರಿಯನಯ್ಯಾ.
ತಾ ಹುಟ್ಟಿದಂದೆ ಯುಗಜುಗಂಗಳು ಹುಟ್ಟಿದವು, ತಾನಳಿದಲ್ಲೆ ಯುಗಜುಗಂಗಳಳಿದವು.
ತನ್ನ ನೇತ್ರಕ್ಕಿಂಪಾದುದೆ ಸುವರ್ಣಸುವಸ್ತು,
ತನ್ನ ಶ್ರೋತಕ್ಕೆ ಸೊಂಪಾದುದೆ ವೇದಶಾಸ್ತ್ರ, ಪುರಾಣ.
ತನ್ನ ಘ್ರಾಣಕ್ಕಿಂಪಾದುದೆ ಪರಿಮಳ, ತನ್ನ ಜಿಹ್ವೆಗಿಂಪಾದುದೆ ರುಚಿ,
ತನ್ನ ಮನ ಮುಳುಗಿದುದೆ ಲಿಂಗ.
ತನ್ನ ನೆತ್ತಿಯಲ್ಲಿ ಸತ್ಯಲೋಕ, ಪಾದದಲ್ಲಿ ಪಾತಾಳಲೋಕ,
ನಡುವೆ ಹನ್ನೆರಡು ಲೋಕ.
ಅಂಡಜ ಪಿಂಡಜ ಉದ್ಭಿಜ ಜರಾಯುಜವೆಂಬ
ಎಂಬತ್ತು ನಾಲ್ಕುಲಕ್ಷ ಜೀವರಾಶಿಗಳು.
ತನ್ನಲ್ಲಿ ಕಾಯವು, ತನ್ನಲ್ಲಿ ಜೀವವು, ತನ್ನಲ್ಲಿ ಪುಣ್ಯವು,
ತನ್ನಲ್ಲಿ ಪಾಪವು, ತನ್ನಲ್ಲಿ ಶಬ್ದವು, ತನ್ನಲ್ಲಿ ನಿಶ್ಯಬ್ದವು.
ಒಂದು ಒಡಲೆಂಬ ಊರಲ್ಲಿ ಒಂಬತ್ತು ಶಿವಾಲಯವು
ಆ ಶಿವಾಲಯದ ಶಿಖರದ ಮೇಲೆ ಶಿವಲಿಂಗದೇವರು
ಪೂರ್ವಭಾಗದಲ್ಲಿ ಚಂದ್ರಾದಿತ್ಯರು, ಪಶ್ಚಿಮ ಭಾಗದಲ್ಲಿ ಪರಶಿವನು
ಉತ್ತರ ಭಾಗದಲ್ಲಿ ಮಹೇಶ್ವರನು, ದಕ್ಷಿಣ ಭಾಗದಲ್ಲಿ ರುದ್ರನು
ಇಂತೀ ಪಂಚೈವರ ಮನದ ಕೊನೆಯ ಕೀಲಿನ ಸಂಚವನರಿದು
ತುರ್ಯಾವಸ್ಥೆಯಲ್ಲಿ ನಿಲಿಸಿ ಒಡಲುವಿಡಿದು ಕಾಂಬುದೆ ಉಪಮೆ.
ಈ ಘಟದೇವತೆಯ ಸಟೆಯೆಂದು ಬಿಸುಟು ಮುಂದೆ ತಾ
ದಿಟವಪ್ಪುದಿನ್ನೆಲ್ಲಿಯದೊ ?
ಪೃಥ್ವಿಯಳಿದಂದೆ ಭೋಗಾದಿ ಭೋಗಂಗಳಳಿದವು.
ಅಪ್ಪುವಳಿದಂದೆ ಮಾಯಾಮೋಹಾದಿಗಳಳಿದವು.
ತೇಜವಳಿದಂದೆ ಹಸಿವು ತೃಷೆಗಳಳಿದವು.
ವಾಯುವಳಿದಂದೆ ನಡೆನುಡಿ ಚೈತನ್ಯಂಗಳಳಿದವು.
ಆಕಾಶವಳಿದಂದೆ ಅವು ಅಲ್ಲಿಯೆ ಲೀಯವಾಯಿತ್ತು.
ಇದು ಕಾರಣ ಉರಿಕೊಂಡ ಕರ್ಪೂರದ ಕರಿ ಕಂಡವರುಂಟೆ ?

ಅಪ್ಪುವುಂಡ ಉಪ್ಪಿನ ಹರಳ ಮರಳಿ ಹೊರೆಯ ಕಟ್ಟಿ ಹೊತ್ತವರುಂಟೆ ?
ವಾಯುಕೊಂಡ ಜ್ಯೋತಿಯ ಬೆಳಗ ಕಂಡವರುಂಟೆ ?
ಹರಿ ಬ್ರಹ್ಮಾದಿಗಳ್ಗೆಯು ಕಾಣಬಾರದಾಗಿ.
ಮಣ್ಣಿನ ಸಾರಾಯದಿಂದ ಮರನುತ್ಪತ್ಯ.
ಮರದ ಸಾರಾಯದಿಂದ ಎಲೆಯುತ್ಪತ್ಯ
ಎಲೆಯ ಸಾರಾಯದಿಂದ ಹೂವ ಉತ್ಪತ್ಯ
ಹೂವ ಸಾರಾಯದಿಂದ ಕಾಯಿ ಉತ್ಪತ್ಯ
ಕಾಯ ಸಾರಾಯದಿಂದ ಹಣ್ಣು ಉತ್ಪತ್ಯ
ಹಣ್ಣಿನ ಸಾರಾಯದಿಂದ ರುಚಿ ಉತ್ಪತ್ಯ
ರುಚಿಯಿಂದತ್ತ ಇಲ್ಲವೆಂಬ ತತ್ವ.
ಮಣ್ಣು ಮರನು ಅಳಿದ ಬಳಿಕ ಬೇರೆ ರುಚಿಯಿಪ್ಪ ಠಾವುಂಟೆ ?
ದೇಹವಳಿದ ಬಳಿಕ ಪ್ರಾಣವಿಪ್ಪುದಕ್ಕೆ ಠಾವುಂಟೆ ? ಇಲ್ಲವಾಗಿ;
ಇದು ಕಾರಣ. ಗುಹೇಶ್ವರನೆಂಬ ಲಿಂಗವ ಒಡಲು ವಿಡಿದು ಕಂಡೆ ಕಾಣಾ.
ಸಿದ್ಧರಾಮಯ್ಯ. ॥೨೩೦॥

೯೨೫

ಇಂದುವಿನ ಬೆಳಗಿನ ಸಂಪತ್ತನಿಂಬುಗೊಂಡ, ಚಕೋರನ
ಧ್ಯಾನವೆಂತಿಪ್ಪದು,– ಅಂತಾಗಿದ್ದೆ ನಾನು.
ಮಾತೆ ವಿಯೋಗವಾದ ಶಿಶುವಿನ
ಧ್ಯಾನವೆಂತಿಪ್ಪುದು – ಅಂತಾಗಿದ್ದೆ ನಾನು.
ಬಂಧನದಲ್ಲಿ ಸಿಕ್ಕಿದ ಫಣಿಯ
ಧ್ಯಾನವೆಂತಿಪ್ಪುದು – ಅಂತಾಗಿದ್ದೆ ನಾನು.
ರಾತ್ರಿಯೊಳು ಮುಗಿದ ಪದ್ಮದ ಭ್ರಮರನ
ಧ್ಯಾನವೆಂತಿಪ್ಪುದು – ಅಂತಾಗಿದ್ದೆ ನಾನು.
ಸ್ವಪ್ನದಲ್ಲಿ ದುಷ್ಟ ಕೇಸರಿಯ ಧ್ಯಾನದ
ಮದಹಸ್ತಿ ಎಂತಿಪ್ಪುದು – ಅಂತಾಗಿದ್ದೆ ನಾನು.
ನೋಟವಗಲಿದ ನೇಹದ
ಧ್ಯಾನವೆಂತಿಪ್ಪುದು – ಅಂತಾಗಿದ್ದೆ ನಾನು.
ಬ್ರಹ್ಮಪಾಶ ವಿಷ್ಣುಮಾಯವನತಿಗಳೆದ ಛಲದಲ್ಲಿ ಏನೆಂದರಿಯದಿದ್ದೆ ನಾನು.
ಗುಹೇಶ್ವರಲಿಂಗವೆ ಸಂಗನಬಸವಣ್ಣನೊಳಗೆ ಲೀಯವಹ ಭರದಲ್ಲಿ
ಏನೆಂದರಿಯದಿದ್ದೆ ನಾನು. ॥೨೩೧॥

೯೨೬

ಇಂದ್ರನಂತೆ ಮಾಡುವೆ. ಚಂದ್ರನಂತೆ ಮಾಡುವೆ,
ಮಾಣಿಕ್ಯದ ಹೊಳಹಿನಂತೆ ಮಾಡುವೆನಯ್ಯಾ.
ನೀ ನೋಡದಿರಯ್ಯಾ.
ಮಾಡುವೆನು ಸೂರ್ಯನ ಪ್ರಭೆಯಂತೆ.
ನೀ ನೋಡಿ ಮತ್ತಾಡಗುವ ಕೃತಕವ ನಾನು ಬಲ್ಲೆ.
ಬೆಡಗು ನಿರಾಳ ಗುಹೇಶ್ವರಾ. ||೨೩೨||

೯೨೭

ಇಕ್ಷುದಂಡಕ್ಕೆ ಕೀಳು ಮೇಲಲ್ಲದೆ
ಸಕ್ಕರೆಯ ದಂಡಕ್ಕೆ ಕೀಳು ಮೇಲುಂಟೆ ?
ಪರುಷಪಾಷಾಣಕ್ಕೆ ಕೀಳು ಮೇಲಲ್ಲದೆ
ಕಡೆಯಾಣಿಗುಂಟೆ ಒರೆಗಲ್ಲು ?
'ಉಂಟು' 'ಇಲ್ಲ' ಎಂಬ ಸಂದೇಹ ನಿಂದಲ್ಲಿ
ಗುಹೇಶ್ವರಲಿಂಗವು ತಾನೆ ಸಿದ್ಧರಾಮಯ್ಯಾ. ||೨೩೩||

೯೨೮

ಇತ(ದಿ?)ರ ಭ್ರಮಿತನು ಭಕ್ತನಲ್ಲ, ಲೋಕೋಪಚಾರಿ ಜಂಗಮವಲ್ಲ.
ಹೇಳಿಹೆನು ಕೇಳಿರಣ್ಣಾ:
ಜಂಗಮ ಪ್ರೇಮಿಯಾದರೆ ಭಸಿತ ರುದ್ರಾಕ್ಷಿ ಸಹ ಶಿವಸ್ವರೂಪ ಕಾಣುತ್ತ,
ನಮಸ್ಕರಿಸಿ ಬಿಜಯಂ ಮಾಡಿಕೊಂಡು ಬಂದು
ಮನಹರುಷದಲ್ಲಿ ಭೋಜನವ ಮಾಡಿಸೂದೀಗ ಭಕ್ತಂಗೆ ಲಕ್ಷಣ.
ಕಾಡೊಳಗಿರಲಿ ಊರೊಳಗಿರಲಿ ಮಠದಲ್ಲಿರಲಿ ಮನೆಯಲ್ಲಿರಲಿ
ಲಿಂಗವಂತರು ಕರೆಯಬಂದರೆ, ಹೋಗಬೇಕೆಂಬ ಅಭಿಲಾಷೆಯುಳ್ಳಡೆ,
ತಾನಿದ್ದಲ್ಲಿ ತಾ ಮಾಡುವಂಥ ಅಷ್ಟವಿಧಾರ್ಚನೆ ಷೋಡಶೋಪಚಾರ
ಲಿಂಗಕ್ರಿಯೆಗಳು ನಿತ್ಯನೇಮವು ಆದ ಬಳಿಕ
ಮತ್ತೆ ತಾ ಹೋಗಿ ತನ್ನ ಗುಂಪ ತೋರದೆ, ಭಕ್ತರಾಶ್ರಯದಲ್ಲಿ
ಭೋಜನವ ಮಾಡುವುದೀಗ ಜಂಗಮಕ್ಕೆ ಲಕ್ಷಣ.
ಅಂತಲ್ಲದೆ ಗೃಹಸ್ಥಾಶ್ರಮದಲ್ಲಿ ಕ್ರಿಯೆ ಮಾಡಿದರೆ
ಜಂಗಮಕ್ಕೆ ಹೇಳುವ ಅರಿವು ಕೂರಮಜೀವಿಯಂತಾಯಿತ್ತಾಗಿ –
ಇದು ಕಾರಣ ಲೋಕೋಪಚಾರಿಗಳಾಗಿ ಒಡಲ ಹೊರೆವವರ
ನಮ್ಮ ಗುಹೇಶ್ವರಲಿಂಗವು ಬಲ್ಲನಾಗಿ ಅವರ ಒಲ್ಲನಯ್ಯಾ. ||೨೩೪||

೬೨೯

ಇದರ ಒಲಿಯುಡಿಯನರುಹಿದಡೆ,
ಹೊಗೆ ಗೋಳಕನಾಥನ ಕೊರಳ ಸುತ್ತಿತ್ತು,
ಮಹೀತಳನ ಜಡೆ ಹತ್ತಿತ್ತು, ಮರೀಚನ ಶಿರ ಬೆಂದಿತ್ತು,
ರುದ್ರನ ಹಾವುಗೆ ಉರಿಯಿತ್ತು, ದೇವಗಣಂಗಳೆಲ್ಲ ವಿತಾಪವಾದರು.
ಮಡದಿಯರು ಮುಡಿಯ ಹಿಡಿದುಕೊಂಡು ಹೋದರು.
ಭಸ್ಮಧಾರಿಯಾದೆ ಕಾಣಾ ಗುಹೇಶ್ವರ. ॥೨೩೫॥

೬೩೦

ಇದು ಎನಗೆ ಆಶ್ಚರ್ಯ; ಹೇಳವ್ವಾ !
ಕಾಯವಿಲ್ಲದ ಸುಖವ ಜೀವವಿಲ್ಲದ ಭವವ !
ಆ ಠಾವ ಹೇಳಾ ಗುಹೇಶ್ವರಲಿಂಗಕ್ಕೆ ? ॥೨೩೬॥

೬೩೧

ಇದು ಲೇಸಾಯಿತ್ತು:
ತುಂಬಿದ ಲೆಕ್ಕಕ್ಕೆ ಮತ್ತೊಂದೆಂದು ಕಡೆಗಾಣಿಸುವಂತೆ,
ಸ್ಥಾಣುವಿನ ಮರೆಯ ಚೋರನಂತೆ,
ಅಂಬುಧಿಯ ಕೊಂಬಿನಲ್ಲಿದ್ದ ವಿಹಂಗನಂತೆ,
ಎಲ್ಲಿ ಬಂದಡೂ ಗುಹೇಶ್ವರನೆಂಬ ಭಾವ ಒಂದಾಯಿತ್ತು ! ॥೨೩೭॥

೬೩೨

ಇದ್ದಿತ್ತೆಂದರಿಯೆ, ಇಲ್ಲವೆಂದರಿಯೆ, ಏನೆಂದರಿಯೆ.
ಪಂಚಭೂತಪ್ರಾಣಿಯ ಏಕಭೂತಪ್ರಾಣಿ ಬಂದು ಸೋಂಕಿದಡೆ
ಎಹಂಗೆ ಇದ್ದಿತ್ತು ಅಹಂಗೆ ಇದ್ದಿತ್ತಾಗಿ – ಇದೇನೆಂದರಿಯೆ.
ಗುಹೇಶ್ವರಲಿಂಗವು ತನ್ನಂತೆ ಮಾಡಿದನಾಗಿ – ಇದೇನೆಂದರಿಯೆ ! ॥೨೩೮॥

೬೩೩

ಇನ್ನೇವೆ ಇನ್ನೇವೆ ?
ಇದು ಮುನ್ನ ಮಾಯದಲಾದ ಭೂತದ ಲಿಂಗ.
ಅಗಲಲಾಗದ ಮುನ್ನ ಆರೋಗಣೆಯಾಯಿತ್ತು.
ಕೈದೊಳೆಯದ ಮುನ್ನ ! (ಎಂಜಲು ಹೋಯಿತ್ತು)
ನಾನಾಗದ ಮುನ್ನ ತಾನೆಯಾಯಿತ್ತು.
ಗುಹೇಶ್ವರನೆಂಬ ಲಿಂಗ ಎನ್ನೊಳಗಡಗಿತ್ತು. ॥೨೩೯॥

೯೩೪

ಇಬ್ಬರ ಮಧ್ಯದಲ್ಲಿ ಒಂದು ವಸ್ತುವುಂಟು,
ಕಂಡಿರೆ ಗಣಂಗಳಿರಾ ? ಕಂಡಿರೆ ಅಣ್ಣಗಳಿರಾ ?
ಗುರುವಿನ ಗುರು ಇದ ಬೇಗಲ(ನ?)ರಿಯೆ
ಗುಹೇಶ್ವರಲಿಂಗದಲ್ಲಿ – ಸಂಗನಬಸವಣ್ಣಾ. ॥೨೪೦॥

೯೩೫

ಇಬ್ಬರ ಮಧ್ಯದಲೊಂದು ಮಗುವು ಹುಟ್ಟಿತ್ತು.
ಆ ಮಗುವಿನ ಹುಟ್ಟ ತಾಯಿಯೂ ಅರಿಯಳು,
ತಂದೆಯೂ ಅರಿಯನು !
ಹೆಸರಿಟ್ಟು ಕರೆದು ಜೋಗುಳವಾಡುತ್ತೈದಾರೆ.
ಕೈ ಬಾಯಿಗೆ ಬಂದ ಶಿಶು ಮೈದೋರದಿದ್ದಡೆ,
ಕಂಡು ನಾನು ನಾಚಿದೆನು ಕಾಣಾ ಗುಹೇಶ್ವರಾ. ॥೨೪೧॥

೯೩೬

ಇಬ್ಬರ ಹಿಡಿವಡೆ ಒಬ್ಬನ ಕೊಲಬೇಕು,
ಒಬ್ಬನ ಕೊಂದರೆ ಎಲ್ಲರೂ ಸಾವರು.
ಎಲ್ಲರೂ ಸತ್ತು ಹಿಡಿದವರಿಬ್ಬರು ಉಳಿದಡೆ,
ಆ ಇಬ್ಬರ ನಂಬಿ ಬಯಲಾದೆ ಗುಹೇಶ್ವರಾ. ॥೨೪೨॥

೯೩೭

ಇಲ್ಲದಲ್ಲಿ ಇಲ್ಲವಿದ್ದಿತ್ತು.
ಇಲ್ಲವೆಂಬುದು ಉಂಟು ನೋಡಾ.
ಉಂಟೆಂದಲ್ಲಿ 'ಇಲ್ಲ' ಉಂಟಾಯಿತ್ತು.
ಉಂಟೆಂದು ತಿಳಿದಡೆ ಅದೆ 'ಇಲ್ಲ'.
ಆ 'ಇಲ್ಲ'ದಲ್ಲಿ ಒಂದು ತಲೆ ಉದಿಸಿತ್ತು.
ಆ ತಲೆಯೊಳಗೆ ಮೂರು ಲಿಪಿಯ ಕಂಡೆ.
ಲಿಪಿಯೊಳಗೊಂದು ಧ್ವನಿಯ ಕಂಡೆ.
ಧ್ವನಿಯ ಬಣ್ಣ ತಲೆಯೆತ್ತದ ಮುನ್ನ,
ಐದು ಬಾಯ ರಕ್ಕಸಿ ಆಗುಳಿಸಿ ನುಂಗಿದಳು.
ಆ ರಕ್ಕಸಿಗೆ ಕೋಡಗ ಹುಟ್ಟಿ, ಕೋಣನ ಕೊರಳ ಕಚ್ಚಿತ್ತ ಕಂಡೆ.

ಕೋಣನ ಕೋಡಗ ಮುರಿದು ಈಡಾಡಿದಡೆ ಕೋಡಗ ಸಿಕ್ಕಿತ್ತು.
ಅಡವಿಯ ಸುಟ್ಟು ಆಕಾಶವ ಹೊಕ್ಕು
ಗುಹೇಶ್ವರಲಿಂಗದಲ್ಲಿ ಗುರುಕಾರುಣ್ಯವ ಪಡೆದನು. ॥೨೪೩॥

೯೩೮

ಇಲ್ಲದ ಶಂಕೆಯನು ಉಂಟೆಂದು ಭಾವಿಸಿದಡೆ
ಅದು ಕಣ್ಣ ಮುಂದೆ ರೂಪಾಗಿ ಕಾಡುತ್ತಿಪ್ಪುದು.
ಇಲ್ಲದ ತನುವ ಉಂಟೆಂಬನ್ನಕ್ಕರ,
ಅದೇ ಮಾಯೆಯಾಗಿ ಕಾಡುತ್ತಿಪ್ಪುದು.
ನಿಃಕ್ರಿಯಾಲಿಂಗಕ್ಕೆ ಕ್ರಿಯಾಂತಲ್ಲದೆ ಆಗದೆಂಬವರ
ಸಂದು ಸಂಶಯ ಮುಂದುಗೆಡಿಸುತ್ತಿಪ್ಪುದು ಕೇಳಾ.
ಮನವ ಮನೆಯ ಮಾಡಿಕೊಂಡಿಪ್ಪ
ಲಿಂಗದ ಅನುವನರಿಯಬಲ್ಲಡೆ,
ಗುಹೇಶ್ವರಲಿಂಗ ದೂರವಿಲ್ಲ ಕೇಳಾ ಮರುಳೆ. ॥೨೪೪॥

೯೩೯

ಇಲ್ಲವೆಂದು ಸಂದೇಹಿಸಿದವಂಗೆ
ಉಂಟೆಂದು ತೋರಿದನಲ್ಲದೆ,
ಶ್ರೀಗುರು ಖೇಚರತ್ವವ ಬಿಟ್ಟು
ಭೂಚರನಾಗಬಹುದೆ ?
ಮಹಾಘನಲಿಂಗವನು ಅರಿದು ನಂಬಿದ ಬಳಿಕ
ಮುಚ್ಚುಮರೆಯುಂಟೆ ಗುಹೇಶ್ವರ ? ॥೨೪೫॥

೯೪೦

ಇವಳ (ಅವಳ?) ನೋಟವೆನ್ನ ಮರ್ತ್ಯಕ್ಕೆ ತಂದಿತ್ತಯ್ಯಾ.
ಇವಳ ಕೂಟ ಸವಿಯನವಗಡಿಸಿ ಕಾಡಿತ್ತಯ್ಯಾ.
ಇವಳ ಬೇಟದ ಬೇರ ಹರಿದಲ್ಲಿ
ತ್ರಿಪುರ ಹಾಳಾದುದ ಕಂಡೆನು.
ಉರಿಯ ಮೇಲೆ ಉರಿ ಎರಗಿದಡೆ
ತಂಪು ಮೂಡಿತ್ತ ಕಂಡೆನು.
ಕರಿಯ ಬೇಡನ ಕಸ್ತುರಿಯ ಮೃಗ ನುಂಗಿದಡೆ
ಹಿರಿಯ ಹೆಂಡತಿ ಓಲೆಗಳೆದುದ ಕಂಡೆನು.

ಕಾರಿರುಳ ಕೋಟೆಯಲಿ ಕಲಿಯ ಕಾಳೆಗವ ಗೆಲಿದು
ಹೂಳಿರ್ದ ನಿಧಾನವ ಕಂಡೆನು ಕಾಣಾ ಗುಹೇಶ್ವರಾ. ॥೨೪೬॥

೯೪೧

ಇಷ್ಟತನುವಿನ ಘಟ್ಟಿಯ ಕರಗಿಸಿ,
ಕಟ್ಟುಗ್ರದ ಕಾಮ ಕ್ರೋಧ ಲೋಭ ಮೋಹ
ಮದ ಮತ್ಸರಂಗಳೆಂಬವ ಸುಟ್ಟುರುಹಿ,
ತನುವಿನ ಅವಗುಣವ ಕೆಡಿಸಿ, ಮನದ ಸಂಚಲವ ನಿಲಿಸಿ
ಸಕಲ ಕರಣಂಗಳ ಅರಿವಿಂಗೆ ಆಹುತಿಯನಿಕ್ಕಿ
ಸುಜ್ಞಾನಪ್ರಭೆಯನುಟ್ಟು ಸುಜ್ಞಾನಪ್ರಭೆಯ ಹೊದೆದು,
ಸುಜ್ಞಾನಪ್ರಭೆಯ ಸುತ್ತಿ ಸುಜ್ಞಾನಪ್ರಭೆಯ ಹಾಸಿ,
ಮಹಾಜ್ಞಾನದಲ್ಲಿ ನಿರ್ಭಾವ ಸಂಪನ್ನನಾದ
ಮಡಿವಾಳನ ಮಡಿಯ ಪ್ರಸಾದವ ನಾನು ಹೊದ್ದ ಕಾರಣ
ನಿರ್ಮಳನಾದೆನು, ನಿಜೈಕ್ಯನಾದೆನು, ನಿಶ್ಚಿಂತನಾದೆನು.
ಇದು ಕಾರಣ–
ಗುಹೇಶ್ವರಲಿಂಗದಲ್ಲಿ ತೆರಹಿಲ್ಲದಿಪ್ಪ
ಮಡಿವಾಳನ ಪ್ರಸಾದದಿಂದ ನಿಮ್ಮ ಘನವನರಿದು
ಬದುಕಿದೆನು ಕಾಣಾ ಸಂಗನಬಸವಣ್ಣಾ. ॥೨೪೭॥

೯೪೨

ಇಷ್ಟಲಿಂಗಕ್ಕೆ ಅಂಗದಲ್ಲಿಯೆ ಮಜ್ಜನ, ಲಲಾಟದಲ್ಲಿಯೆ ಗಂಧಾಕ್ಷತೆ.
ತುರುಬಿದ ಪುಷ್ಪಚಯವೆ ಲಿಂಗಕ್ಕೆ ಪೂಜೆ.
ಜಿಹ್ವೆ ಸೋಂಕಿದ ಷಡುರಸಾನ್ನವೆ ಲಿಂಗಕ್ಕೆ ನೈವೇದ್ಯ.
ತಾಂಬೂಲ ಸವಿಹವೆ ಲಿಂಗಕ್ಕೆ ವೀಳೆಯ.
ಅಂಗಚ್ಛಾದನವಸ್ತ್ರವೆ ಲಿಂಗಕ್ಕೆ ವಸ್ತ್ರ,
ಕಂಡು ಕೇಳಿದ ಗೀತ ವಾದ್ಯ ನೃತ್ಯಾದಿಗಳೆ ಲಿಂಗದ ಕೇಳಿಕೆ
ಇಂತೀ ಅಂಗದಲ್ಲಿ ಇಷ್ಟಲಿಂಗಪೂಜೆಯ ಮಾಡುವ
ಲಿಂಗಸಂಪನ್ನರ ತೋರಾ ಗುಹೇಶ್ವರಾ. ॥೨೪೮॥

೯೪೩

ಇಷ್ಟಲಿಂಗದ ಕೂಟ, ಪ್ರಾಣಲಿಂಗದ ಸಂಗ,
ಭಾವಲಿಂಗದ ಸಮರಸವ ಬಲ್ಲವರಾರೊ

ಅವರನೆನ್ನ ಸದ್ಗುರು ಅನುಮಿಷೇಶ್ವರನೆಂಬೆ.
ಆ ನಿಜಶಿವಯೋಗವ ಮರೆಯದವರಿಗೆ ಅಣಿಮಾದಿ ಅಷ್ಟೈಶ್ವರ್ಯದೊಡನೆ
ಕೂಡಿದ ಸಕಲ ಲಕ್ಷಣ ಸಂಪನ್ನರು ಸರಿಯಲ್ಲ.
೬೬ ಸಿದ್ಧಿಗಳೊಡನೆ ಕೂಡಿದ ಸಿದ್ಧ ಪುರುಷರೂ ಸರಿಯಲ್ಲ.
ಲಾವಣ್ಯದೊಡನೆ ಕೂಡಿದ ಜಯಂತ ಮನ್ಮಥ ವಸಂತರೂ ಸರಿಯಲ್ಲ.
ಕಲ್ಪವೃಕ್ಷ ಕಾಮಧೇನು ಚಿಂತಾಮಣಿ ಭದ್ರಪೀಠ ಮೊದಲಾದ
ಮಹದೈಶ್ವರ್ಯವುಳ್ಳ ದೇವೇಂದ್ರನೂ ಸರಿಯಲ್ಲ.
ದೇವೇಂದ್ರನ ಮೇಲೆ ಕೋಟ್ಯನುಕೋಟಿ ಮೊದಲಾದ
ಹರಿ ವಿರಿಂಚ್ಯಾದಿಗಳ ಸಂಪದವೂ ಸರಿಯಲ್ಲ.
ಶ್ರುತಿ ವಿದ್ಯದೊಡನೆ ಕೂಡಿದ ವ್ಯಾಸ ದಕ್ಷಾದಿಗಳೂ ಸರಿಯಲ್ಲ.
ಸಪ್ತಕೋಟಿ ಮಹಾಮಂತ್ರಂಗಳ ಬಲ್ಲಂತಹ ಮಹಾಮುನಿಗಳೂ ಸರಿಯಲ್ಲ.
ಮಹಾರಾಜಯೋಗದೊಡನೆ ಕೂಡಿದ ಮನುಮಾಂಧಾತರೂ ಸರಿಯಲ್ಲ.
ಮಹಾಲಿಂಗದೊಡನೆ ಕೂಡಿದ ಶಾಂಭವಯೋಗಕ್ಕೆ ಆವಾವ ಪದವೂ ಸರಿಯಲ್ಲ.
ಈ ಶಾಂಭವಯೋಗವಾರಲ್ಲಿ ಸ್ಥಾವರವಾಗಿದ್ದಿತ್ತು, ಅವರಲ್ಲಿ ಸರ್ವಲಕ್ಷಣಂಗಳು,
ಸರ್ವ ವಿಚಿತ್ರಂಗಳು, ಸರ್ವ ಸುಖಂಗಳು ಸರ್ವ ಭಕ್ಷ್ಯಂಗಳು,
ಸರ್ವೈಶ್ವರ್ಯಂಗಳು ಸರ್ವ ಪದಂಗಳು ಸರ್ವ ಸಿದ್ಧಿಗಳು
ಸರ್ವ ಕ್ರಮಂಗಳು ಸರ್ವ ಕರ್ತೃತ್ವಮುಂಟು.
ಪ್ರಕೃತಿಯೋಗವಂ ಮಾಡುವ ನರಸುರಾಸುರರು
ಮೂಲಪ್ರಕೃತಿಯೋಗವ ಮಾಡುವ ಮನು ಮಾಂಧಾತರು ತೃಣ ಮಾತ್ರವು.
ನಿತ್ಯನಿಜಶಿವಸ್ವರೂಪವಾದ ಶಾಂಭವ ಯೋಗಿಗಳಿಗೆ
ಸರ್ವಯೋಗಂಗಳು ತೃಣಮಾತ್ರವು– ಗುಹೇಶ್ವರಲಿಂಗವನರಿದರಾಗಿ. ॥೨೪೯॥

೯೪೪

ಇಷ್ಟಲಿಂಗದಲ್ಲಿ ವಿಶ್ವಾಸ ಬಲಿದರೆ ಆಯತಲಿಂಗ.
ಆ ಇಷ್ಟಲಿಂಗದಲ್ಲಿ ಭಾವಮನೋವೇದ್ಯವಾದಲ್ಲಿ ಸ್ವಾಯತಲಿಂಗ.
ಆ ಇಷ್ಟಲಿಂಗದ ಭಾವ ಮನೋವೇದ್ಯವಾದ ಸುಖವು
ಭಿನ್ನವಾಗಿ ತೋರದೆ, ಅನುಪಮ ಪರಿಣಾಮ ಭರಿತವಾದಲ್ಲಿ ಸನ್ನಹಿತಲಿಂಗ.
ಇಂತು, ಇಷ್ಟಲಿಂಗ ಪ್ರಾಣಲಿಂಗ ತೃಪ್ತಿಯ ಭಾವಲಿಂಗಂಗಳೆಂಬ ಲಿಂಗತ್ರಯಂಗಳು.
ತನುತ್ರಯಂಗಳ ಮೇಲೆ ಆಯತ ಸ್ವಾಯತ ಸನ್ನಹಿತಂಗಳಾದ
ಶರಣನ ಪಂಚಭೂತಂಗಳಳಿದು ಲಿಂಗ ತತ್ವಂಗಳಾಗಿ,
ಆತನ ಜೀವ ಭಾವವಳಿದು ಪರಮಾತ್ಮನೆನಿಸಿದಲ್ಲಿ
ಷಡಂಗಯೋಗವಾದುದು ಕಾಣಾ ಗುಹೇಶ್ವರಾ. ॥೨೫೦॥

೯೪೫

ಇಷ್ಟಲಿಂಗ ಪ್ರಾಣಲಿಂಗವೆಂಬ ಭೇದವನಾರು ಬಲ್ಲರು ಹೇಳಾ ?
ಅಂತರಂಗವೆಂಬ ಶಬ್ದಕ್ಕೆ ಬಹಿರಂಗ ಮುಂದುಗೊಂಡಿಪ್ಪುದು.
ಬಹಿರಂಗವೆಂಬ ಶಬ್ದಕ್ಕೆ ಅಂತರಂಗ ಮುಂದುಗೊಂಡಿಪ್ಪುದು.
ಮನವನೆಡೆಗೊಂಡ ಲಿಂಗದ ಅರಿವು,
ವಿಚಾರ ವ್ಯಾಕುಲಕ್ಕೊಳಗಾಗಬಾರದೆಂದು
ಮನ ಭಾವ ಜ್ಞಾನ ನೋಟಕ್ಕೆ ತಂದು, ಕರಸ್ಥಲದಲ್ಲಿ ನಿಕ್ಷೇಪಿಸಿ
ಅಂತರಂಗ ಬಹಿರಂಗವೆಂದರಿಯದೆ, ಅನಿಮಿಷನಾಗಿಪ್ಪನು ಶರಣನು.
ಪ್ರಾಣಲಿಂಗದ ಪ್ರಸನ್ನಮುಖವ ನೋಡಿ ಪರಿಣಾಮಿಸಲೋಸುಗ
ತೇಜ (ಜಂಗಮ?)ವೆಂಬ ದರ್ಪಣವ ಹಿಡಿದಿಪ್ಪ ನೋಡಯ್ಯಾ.
ಗುಹೇಶ್ವರಲಿಂಗದಲ್ಲಿ ನಿಜವನೆಯ್ದಿಹೆನೆಂದಡೆ,
ಕುರುಹುವಿಡಿದು ಕುರುಹುಗೆಡಬೇಕು ನೋಡಾ ಸಿದ್ಧರಾಮಯ್ಯಾ. ॥೨೫೧॥

೯೪೬

ಇಷ್ಟಲಿಂಗವ ಪೂಜಿಸಿದರಾಗಿ ನಿಷ್ಠೆ ನೆಲೆಗೊಳ್ಳದು.
ಬಹುಲಿಂಗವ ಪೂಜಿಸಿ ಭ್ರಮಿತರಾದರು.
ಅನ್ಯಲಿಂಗವ ಪೂಜಿಸಿ ಭಿನ್ನರಾದರು.
ಸ್ಥಾವರ ಲಿಂಗವ ಪೂಜಿಸಿ ಸಾವಿಗೊಳಗಾದರು
ಬಳ್ಳ ಲಿಂಗವೆಂದು ಪೂಜಿಸಿ ಏನುವನರಿಯದೆ ಹೋದರು.
ಗುಹೇಶ್ವರನೆಂಬ ಲಿಂಗವ ಪೂಜಿಸಿ
ನಿಮ್ಮ ಶರಣರು ಅಲ್ಲಿಗಲ್ಲದೆ ಇಲ್ಲಿಗಲ್ಲದೆ ಹೋದರು ನೋಡಾ. ॥೨೫೨॥

೯೪೭

ಇಷ್ಟಲಿಂಗವೆ ಅಂಗಲಿಂಗ ಪ್ರಾಣಲಿಂಗವೆ ಮನಲಿಂಗವಾಯಿತ್ತು ನೋಡಾ.
ಅಂಗಲಿಂಗವಾಗಿ ನಡೆನುಡಿಗತಿಯನರಿಯದು,
ಪ್ರಾಣಲಿಂಗವಾಗಿ ನವನಾಳದ ಸುಳುಹನರಿಯದು.
ಮನ ಲಿಂಗವಾಗಿ ನೆನಹುಗೆಟ್ಟಿತ್ತು,
ಅನುಭಾವ ಲಿಂಗವಾಗಿ ವಿಚಾರವರತಿತ್ತು.
ಭಾವಲಿಂಗವಾಗಿ ನಿರ್ಭಾವವಳವಟ್ಟಿತ್ತು.
ಸರ್ವಕ್ರೀಗಳೆಲ್ಲ ಲಿಂಗವಾಗಿ ಮಾರ್ಗಕ್ರೀಯ ಹೊಲಬನರಿದು
ಅರಿವು ಲಿಂಗವಾಗಿ ಮರಹುಗೆಟ್ಟಿತ್ತು.
ಅಂತರಂಗ ಲಿಂಗವಾಗಿ ಬಹಿರಂಗವೆಂದರಿಯದು

ಬಹಿರಂಗ ಲಿಂಗವಾಗಿ ಅಂತರಂಗದ ಶುದ್ಧಿಯನರಿಯದು.
ಇಂತು ಸರ್ವಾಂಗಲಿಂಗವಾಗಿ ಸರ್ವೇಂದ್ರಿಯ ಗಮನ ಕೆಟ್ಟಿತ್ತು.
ಮಹಾಘನವಿಂಬುಗೊಂಡಿತ್ತಾಗಿ ನಿಷ್ಪತಿ ಕರಿಗೊಂಡಿತ್ತು.
ಗುಹೇಶ್ವರಲಿಂಗದಲ್ಲಿ ಪ್ರಾಣಲಿಂಗ ಸಂಬಂಧ ಸ್ವಯವಾಯಿತ್ತು ನೋಡಾ
ಸಿದ್ಧರಾಮಯ್ಯಾ. ||೧೫೩||

೬೪೮

ಇಷ್ಟಲಿಂಗವೆ ಪ್ರಾಣಲಿಂಗವೆಂಬ
ಮಿಟ್ಟಿಯ ಭಂಡರು ನೀವು ಕೇಳಿರೆ.
ಇಷ್ಟಲಿಂಗವನೂ ಕಾಯವನೂ ಮೆಟ್ಟಿ ಹೂಳುವಲ್ಲಿ,
ಬಿಟ್ಟು ಹೋಹ ಪ್ರಾಣಕ್ಕೆ
ಇನ್ನಾವುದು ಲಿಂಗ ಹೇಳಾ ಗುಹೇಶ್ವರಾ ? ||೧೫೪||

೬೪೯

ಇಹವ ತೋರಿದನು ಶ್ರೀಗುರು; ಪರವ ತೋರಿದನು ಶ್ರೀಗುರು.
ಎನ್ನ ತೋರಿದನು ಶ್ರೀಗುರು; ತನ್ನ ತೋರಿದನು ಶ್ರೀಗುರು.
ಗುರು ತೋರಿದಡೆ ಕಂಡೆನು ಸಕಲ ನಿಷ್ಕಲವೆಲ್ಲವ.
ಗುರು ತೋರಿದಡೆ ಕಂಡೆನು ಗುರುಲಿಂಗಜಂಗಮ ಒಂದೆ ಎಂದು.
ತೋರಿ ಕರಸ್ಥಲದಲ್ಲಿದ್ದನು ಗುಹೇಶ್ವರಲಿಂಗನು. ||೧೫೫||

೬೫೦

ಈಶ್ವರನ ದ್ರೋಣವ ಮಾಡಿ, ಪದ್ಮನಾಭನ ನಾರಿಯ ಮಾಡಿ,
ಕಮಲಜನೆಂಬ ಬಾಣವ ತೊಟ್ಟು, ತ್ರಿಭುವನವನೆಚ್ಚವರಾರೊ ?
ಚಂದ್ರಸೂರ್ಯರ ಬೆನ್ನ ಮೆಟ್ಟಿ, ಸುವರ್ಣದ ಮಳೆಯ ಕರಸಿದವರಾರೊ ?
ದೇವದಾನವ ಮಾನವರೆಲ್ಲ, ಈ ಬಾಣಕ್ಕೆ ಗುರಿಯಾಗಿ ಬಿದ್ದರು.
ಗುಹೇಶ್ವರ ಶೂನ್ಯ ನಿಶ್ಶೂನ್ಯದೊಳಗೆ ! ||೧೫೬||

೬೫೧

ಉಂಬುವುದ ಉಣಲೆ ಬೇಕು. ಮುಟ್ಟುವುದ ಮುಟ್ಟಲೆ ಬೇಕು.
ಮಾಡುವುದ ಮಾಡಲೆ ಬೇಕು. ನೋಡುವುದ ನೋಡಲೆ ಬೇಕು.
ಕೂಡುವುದ ಕೂಡಲೆ ಬೇಕು.

ಉಂಡು ಉಟ್ಟು ಕಂಡು ಕೇಳಿ ಹೇಳಿ
ಬಿಟ್ಟು-ಬಿಡದಾತ ಕಾಣಾ ಗುಹೇಶ್ವರಾ. ॥೨೫೭॥

೯೫೨

ಉಚ್ಛಿಷ್ಟಕಾಯ ಚಾಂಡಾಲದೊಳಗೆ ಜನಿಸಿದ
ಹದಿನಾಲ್ಕು ಭುವನದೊಳಗೆಲ್ಲಾ,
'ನಾವು ಬಲ್ಲೆವು, ನಾವು ಹಿರಿಯರು, ನಾವು ಘನಮಹಿಮರು' ಎಂಬರೆಲ್ಲಾ
ಮತ್ತೆ ಸಾವರೆ, ಇದೇನೊ ಇದೆಂತೊ ?
ಗುಹೇಶ್ವರನೊಬ್ಬ ತಪ್ಪಿಸಿ
ಮಿಕ್ಕಾದವರೆಲ್ಲ ಪ್ರಳಯಕ್ಕೆ ಒಳಗು ! ॥೨೫೮॥

೯೫೩

ಉದಕಕ್ಕೆ ನೆಲೆಯುಂಟೆ ?
ವಾಯುವಿಂಗೆ ಶಿರ ಉಂಟೆ ? ಶಬ್ದಕ್ಕೆ ಕಡೆಯುಂಟೆ ?
ಗುರುವಿನ ಗುರು ಜಂಗಮಕ್ಕೆ ಬೇರೆ ಗುರು ಉಂಟೆ ?
ಈ ಶಬ್ದವ ಕೇಳಿ ನಾನು ಬೆರಗಾದೆ ಕಾಣಾ ಗುಹೇಶ್ವರಾ. ॥೨೫೯॥

೯೫೪

ಉದಕದ ಕೊಡನ ಹೊತ್ತಾಡುವ ಗೊರವಿತಿಯ ಕೈಯಲ್ಲಿ ಕಂಕಣ,
ಉಲಿವ ಗೆಜ್ಜೆ ಚರಣದಲ್ಲಿ.
ಉರಿಯ ಗೊರವನ ನೆರೆವ ಭರವಸದಿಂದ ಬಂದಿರಲು
ಬಹಳ ಮುಳ್ಳಡ್ಡಲಾದವಲ್ಲಾ !
ಕಂಕಣದುಲುಹು ನಂದಿ, ಕಣ್ಣುದೆರೆದಾ ಮುಳ್ಳಳಿಯಲು
ಕಾಡುಗಿಚ್ಚೆದ್ದು ಕರಡವ ಸುಟ್ಟಂತೆ
ಪ್ರಾಣಗುಣ ಪ್ರಧ್ವಂಸಕಂಗೆ ಅನ್ಯೋನ್ಯ ಭಾವತ್ರಯವುಂಟೆ ?
ಶರಣಲಿಂಗಕ್ಕೆ ಸಂದಿಲ್ಲ ಗುಹೇಶ್ವರಾ. ॥೨೬೦॥

೯೫೫

ಉದಕದೊಳಗಣ ಕಿಚ್ಚು ನನೆಯಿತ್ತು,
ಕಿಚ್ಚಿನೊಳಗಣ ತೇಜ ಬೆಂದಿತ್ತು; – ತಿಳಿದು ನೋಡಾ

ಅದೇನೊ ಅದೆಂತೊ ? ಸಂಬಂಧಿಗಳು ತಿಳಿಯರು ನೋಡಾ.
ಬೆಳಗಿನೊಳಗಣ ಕತ್ತಲೆಯಡಗಿತ್ತು;
ಗುಹೇಶ್ವರನೆಂಬುದು ಅಲ್ಲಿಯೆ ಲಿಂಗೈಕ್ಯವು. ॥೨೬೧॥

೯೫೬

ಉದಕದೊಳಗೊಂದು ಸೆಜ್ಜೆಯಾಯಿತ್ತು.
ಸೆಜ್ಜೆಯೊಳಗೊಂದು ಕಿಚ್ಚು ಹುಟ್ಟಿತ್ತು.
ಇದೇನೊ ಇದೆಂತೊ ? ನೀನರಸಿಹೆನೆಂಬ ಸಂಬಂಧವಿಲ್ಲ.
ಇದೇನೊ ಇದೆಂತೊ ? ನೀನರಿದಿಹೆನೆಂಬ ಸಂಬಂಧವಿಲ್ಲ.
ಇದೇನೊ ಇದೆಂತೊ ? ನೀನೊಲಿಸಿಹೆನೆಂಬ ಸಂಬಂಧವಿಲ್ಲ.
ಉದಯಮುಖದಲ್ಲಿ ಕತ್ತಲೆಯಡಗಿತ್ತು.
ಗುಹೇಶ್ವರನೆಂಬ ನಾಮವಲ್ಲಿಯೆ ನಿಂದಿತ್ತು. ॥೨೬೨॥

೯೫೭

ಉದಕ ಮಜ್ಜನವಲ್ಲ ಪತ್ರೆ ಪೂಜೆಯಲ್ಲ.
ಧೂಪ ಪರಿಮಳವಲ್ಲ, ಕಂಚು ಬೆಳಗಲ್ಲ, ಸಯಧಾನ ಅರ್ಪಿತವಲ್ಲ !
ಅದೆಂತೆಂದಡೆ:
ಸಜ್ಜನವೆ ಮಜ್ಜನ, ಸತ್ಯಸದಾಚಾರವೆ ಪತ್ರೆ ಪುಷ್ಪ.
ಅಷ್ಟಮದಂಗಳ ಸುಟ್ಟುದೆ ಧೂಪ, ನಯನವೆ ಸ್ವಯಂ ಜ್ಯೋತಿ,
ಪರಿಣಾಮವೆ ಅರ್ಪಿತ ಕಾಣಾ ಗುಹೇಶ್ವರಾ. ॥೨೬೩॥

೯೫೮

ಉದಮದದ ಯೌವನವನೊಳಕೊಂಡ ಸತಿ,
ನೀನು ಇತ್ತಲೇಕೆ ಬಂದೆಯವ್ವಾ
ಸತಿ ಎಂದಡೆ ಮುನಿವರು ನಮ್ಮ ಶರಣರು.
ನಿನ್ನ ಪತಿಯ ಕುರುಹ ಹೇಳಿದಡೆ ಬಂದು ಕುಳ್ಳಿರು,
ಅಲ್ಲದಡೆ ತೊಲಗು ತಾಯೆ.
ನಮ್ಮ ಗುಹೇಶ್ವರನ ಶರಣರಲ್ಲಿ
ಸಂಗಸುಖಸನ್ನಹಿತವ ಬಯಸುವಡೆ
ನಿನ್ನ ಪತಿ ಯಾರೆಂಬುದ ಹೇಳಾ ಎಲೆ ಅವ್ವಾ ? ॥ ೨೬೪ ॥

೯೫೯

ಉದಯಬಿಂದು ರೂಪಾಯಿತ್ತು.
ಅಂತರಬಿಂದು ನಿರೂಪಾಯಿತ್ತು.
ಊರ್ಧ್ವಬಿಂದು ನಿಶ್ಶೂನ್ಯವಾಯಿತ್ತು.
ತ್ರಿವಿಧಲಿಂಗವ ಕೂಡಿ ಬಯಲಾಯಿತ್ತು.
ಗುಹೇಶ್ವರಲಿಂಗದಲ್ಲಿ. ॥೨೬೫॥

೯೬೦

ಉದಯಮುಖದಲ್ಲಿ ಹುಟ್ಟಿದ ಪ್ರಾಣಿಗಳು
ಅಸ್ತಮಾನಕ್ಕೆ ಅಳಿದರಲ್ಲಾ !
ಅಂದಂದಿನ ಘಟಜೀವಿಗಳು ಬಂದ ಬಟ್ಟೆಯಲ್ಲಿ ಹೋದರಲ್ಲಾ !
ಗುಹೇಶ್ವರನೆಂಬ ಲಿಂಗವು ಆರಿಗೆಯೂ ಇಲ್ಲವಯ್ಯಾ. ॥೨೬೬॥

೯೬೧

ಉಪಪಾತಕ ಮಹಾಪಾತಕಂಗಳ ಮಾಡಿದ ಕರ್ಮಂಗಳು ಕೋಟ್ಯನುಕೋಟಿ,
ಒಬ್ಬ ಶಿವಶರಣನ ಅಂಗಳವ ಕಂಡಲ್ಲಿ ಅಳಿದು ಹೋಹುದು ನೋಡಯ್ಯಾ.
ಅದೇನು ಕಾರಣವೆಂದಡೆ:
ಆ ಶಿವಶರಣನ ಅಂತರಂಗದಲ್ಲಿ ಶಿವನಿಪ್ಪನು.
ಶಿವನಿದ್ದಲ್ಲಿ ಕೈಲಾಸವಿಪ್ಪುದು
ಕೈಲಾಸವಿದ್ದಲ್ಲಿ ಸಮಸ್ತ ರುದ್ರಗಣಂಗಳಿಪ್ಪರು.
ಅಲ್ಲಿ ಅಷ್ಟಾಷಷ್ಟಿ ತೀರ್ಥಂಗಳಿಪ್ಪವು.
ಇಂತಪ್ಪ ಶರಣಬಸವಣ್ಣನ ಅಂಗಳವ ಕಂಡೆನಾಗಿ
ಗುಹೇಶ್ವರಲಿಂಗದ ಕಂಗಳಿಗೆ ತೃಪ್ತಿಯಾಯಿತ್ತು ಕಾಣಾ
ಸಿದ್ಧರಾಮಯ್ಯಾ. ॥೨೬೭॥

೯೬೨

ಉಪಮೆಗುಪಮಾನ ಮನುದೇವತಾದಿಗಳೆಲ್ಲಾ
ಜಪತಪ ಮಹಾ ದಿವ್ಯ ಧ್ಯಾನ ಮಂತ್ರಗಳಿಂದ
ಪರಿಮಿತ ಸೇವನಾರತರಾಗಿ
ನಿಮ್ಮ ಪದನುತಿಯಿಂ ಕೃತಾರ್ಥರಾಗಿ
ತೃಪ್ತಿಪಟ್ಟಿಪ್ಪರಲ್ಲದೆ, ನಿಚ್ಚಯದ ಮಹಿಮೆಯ,

ಪರಾಪರಂ ಪರಮಗಮ್ಯಭಾವಾತೀತ ವಿಪುಳ
ಜ್ಯೋತಿರ್ಲಿಂಗ ವಿಶ್ವತೋಮುಖ ಮುಸಿಗಿರ್ದ ಘನವಾವುದು ?
ತಿಳಿಯದೆ ಹೋದರಲ್ಲಾ ಗುಹೇಶ್ವರಾ. ॥೨೬೮॥

೯೬೩

ಉಪಾಧಿಯಿಲ್ಲದೆ ಬೇಡಬಲ್ಲಡೆ, ಗಮನವಿಲ್ಲದೆ ಸುಳಿಯಬಲ್ಲಡೆ,
ನಿರ್ಗಮನಿಯಾಗಿರಬಲ್ಲಡೆ, ಅದು ವರ್ಮ,
ಅದು ಸಂಬಂಧ, ಅವರ ನಡೆ ಪಾವನ,
ಅವರ ನುಡಿ ಸತ್ಯ, ಅವರ ಜಗದಾರಾಧ್ಯರೆಂಬೆನು ಕಾಣಾ
ಗುಹೇಶ್ವರಾ. ॥೨೬೯॥

೯೬೪

ಉಭಯದೃಷ್ಟಿ ಏಕದೃಷ್ಟಿಯಲ್ಲಿ ಕಾಬಂತೆ
ದಂಪತಿ ಏಕಭಾವವಾಗಿ ನಿಂದಲ್ಲಿ,
ಗುಹೇಶ್ವರಲಿಂಗಕ್ಕೆ ಅರ್ಪಿತವಾಯಿತ್ತು, – ಸಂಗನಬಸವಣ್ಣ. ॥೨೭೦॥

೯೬೫

ಉಲಿವ ತರುವಲಿಗಳೆಲ್ಲ ಗಿಳಿವಿಂಡುಗೆಡೆದಿಹರು
ಅರಿಯದ ಮೌನಿಯ ಮುಕ್ತಿಯಿದೇನೊ ?
ಅರಿದಡೇನು ಅರಿಯದಿದ್ದಡೇನು.
ತನ್ನಲ್ಲಿದ್ದ ವಸ್ತುವ ತಾನರಿಯದನ್ನಕ್ಕ ?
ಅಂಗದಲ್ಲಿ ಒದಗಿದ ಲಿಂಗವನರಿಯದೆ
ಭಂಗಬಟ್ಟರು ಕಾಣಾ ಗುಹೇಶ್ವರಾ. ॥೨೭೧॥

೯೬೬

ಉಳ್ಳವರು ಹಗೆಹ ತೆಗೆವನ್ನಕ್ಕರ.
ಇಲ್ಲದವರ ಹರಣ ಹೋಯಿತ್ತೆಂಬ ಗಾದೆ ಎನಗಾಯಿತ್ತು.
ಮಾತು ಬಣ್ಣಿಸಲು ಹೊತ್ತು ಹೋಯಿತ್ತಯ್ಯಾ.
ನಿನಗೆ ಅದೆ. ಹರಿನುಡಿಗೆ ಕಡೆಯಿಲ್ಲ.
ಒಬ್ಬರ ನೋಡುವಾಗ.
ಅರುವತ್ತು ಮನುಷ್ಯರ ನೋಡುವ ಹಾಂಗೆ ಆಗುತ್ತಿದೆ.

ಶೂನ್ಯಸಿಂಹಾಸನ ಬವರಿಗೊಡುತ್ತಿದೆ.
ಪ್ರಾಣ ಹೆಡತಲೆಯಲ್ಲಿ ಹೋಗುತ್ತಿದೆ.
ಗುಹೇಶ್ವರ ಹಸಿದನು,
ಪದಾರ್ಥವ ನೀಡಯ್ಯಾ ಸಂಗನಬಸವಣ್ಣಾ. ॥೨೭೨॥

೯೬೭

ಊರೊಳಗಣ ಘನಹೇರಡವಿಯೊಳೊಂದು
ಬೇರು ಮೇಲು, ಕೊನೆ ಕೆಳಗಾಗಿ ಸಸಿ [ಹುಟ್ಟಿತ್ತು.]
ಆರೈದು ನೀರಸೆರೆದು ಸಲುಹಲಿಕ್ಕೆ,
ಅದು ಸಾರಾಯದ ಫಲವಾಯಿತ್ತಲ್ಲಾ !
ಬಾರುಗೊಂಬಿನಲುದುರಿದ ಹಣ್ಣ ಮೆಲಿದವ
ಘೋರ ಸಂಸಾರಭವಕ್ಕೆ ಸಿಕ್ಕಿದ.
ಬೇರಿಂದಲಾದ ಫಲವ ದಣಿದುಂಡವ, ಊರಿಂದ ಹೊರಗಾದ
ಕಾಣಾ ಗುಹೇಶ್ವರಾ. ॥೨೭೩॥

೯೬೮

ಎಂಟು ನೆಲೆಯ ಮಣಿಮಾಡದ ಮಂಟಪದ ಮೇಲೆ,
ಏಳು ವಶ್ಯ ಕನ್ನಿಕೆಯರು,
ಮಹಾಲಿಂಗಕ್ಕೆ ಮಾಣಿಕದಾರತಿಯನೆತ್ತಿದರಲ್ಲಾ !
ಚಾಮರಂಗಳು ಬೀಸದೆ, ಮಾಣಿಕಸೂಸಕ ಕೆದರದೆ
ಅಧರಪಟಂಗಳು ಹಳಚದೆ, ಸ್ವಯಲಿಂಗಾರ್ಚನೆಯ ಮಾಡುವಲ್ಲಿ
ಪ್ರಸಾದಕ್ಕೆ ಕರುಣದಿಂ ದಯಮಾಡ್ವೆ (ದಯಮಾಡಿಸ್ಯೆ?) ಗುಹೇಶ್ವರಾ. ॥೨೭೪॥

೯೬೯

ಎಂತಯ್ಯಾ ?
ನೊಸಲಲ್ಲಿ ಕಣ್ಣು, ಮನದಲ್ಲಿ ವಿರಸ, ನುಡಿವುದೆಲ್ಲ ಭಕ್ತಿರಸ–
ಜ್ಞಾನವೆಂತು ಹೇಳಾ ? ನಿರಹಂಕಾರವೆಂತು ಹೇಳಾ ?
ಅರುಹಿನ ಕುರುಹಿನ ಮರವೆ ಮಾತಿನೊಳಗದೆ.
ನಿನ್ನಿಂದ ನಿಜಪದವೆಂತು ಸಾಧ್ಯವಪ್ಪುದು ಹೇಳಾ ?
ಕುರುಹಳಿದು ಕುರುಹನರಿಯ ಬಲ್ಲಡೆ
ಗುಹೇಶ್ವರಲಿಂಗದಲ್ಲಿ ಉಭಯಗೆಟ್ಟಲ್ಲದೆ
ಪ್ರಸಾದವಿಲ್ಲ ಕಾಣಾ ಮಡಿವಾಳ ಮಾಚಯ್ಯಾ. ॥೨೭೫॥

೯೭೦

ಎಂಬತ್ತುನಾಲ್ಕು ಲಕ್ಷ ಜೀವರಾಶಿಗೂ ನೆಲನೊಂದೆ, ಜಲವೊಂದೆ,
ಲೋಕಸಂಬಂಧಿಗೂ ಲಿಂಗಸಂಬಂಧಿಗೂ
ನೆಲನೊಂದೆ ಜಲವೊಂದೆ,
ವಿರಕ್ತರ ಹಸ್ತಮುಟ್ಟಿ ಬಂದ ಕಾರಣ
ಅಗ್ಗವಣಿಯೆನಸಿತ್ತು, ಸಿತಾಳವೆನಸಿತ್ತು.
ಇಂತಪ್ಪ ಸುಪವಿತ್ರದ ಅಗ್ಗವಣಿಯನೊಲ್ಲದೆ,
ಅ[ನೇಕ] ಒರತೆಯ ನೀರಿಂಗೆರಗಿ
ಬರುದೊರೆ ಹೋಹರಿಗೆ ಮರಳಿ ಭಕ್ತರ ಪೀಠವೇಕೆ
ಹೇಳಾ ಗುಹೇಶ್ವರಾ ? ॥೨೭೬॥

೯೭೧

ಎಡದ ಕಾಲಲೊದ್ದಡೆ ಬಲದ ಕಾಲ ಹಿಡಿವುದು
ಬಲದ ಕಾಲಲೊದ್ದಡೆ ಎಡದ ಕಾಲ ಹಿಡಿವುದು.
'ತ್ರಾಹಿ ತ್ರಾಹಿ ತಪ್ಪೆನ್ನದು' ಎಂದು
ಗುಹೇಶ್ವರನ ಶರಣರನೊಡಗೊಂಡು ಬಾರಯ್ಯಾ ಸಂಗನಬಸವಣ್ಣಾ. ॥೨೭೭॥

೯೭೨

ಎಡದ ಕೈಯ ಲಿಂಗವ ಬಲದ ಕೈಯಲ್ಲಿ ಮುಟ್ಟಿ,
ಸ್ಪರ್ಶನವ ಮಾಡುವ ಕರ್ಮಿಯ ನಾನೇನೆಂಬೆ !
ಭವಭವದಲ್ಲಿ ಬಹ ಕರ್ಮಿಯ ನಾನೇನೆಂಬೆ !
ಸತ್ಯವೇನವದಿರ, ಮಿಥ್ಯವೇನವದಿರ
ಹಿಡಿದ ಕೈ ತಾನೆ ಎಂದರಿಯರಾಗಿ.
ಗುಹೇಶ್ವರಲಿಂಗವು ಬೆರಗಾದನು ! ॥೨೭೮॥

೯೭೩

ಎಡೆಬಿಡಾರಕ್ಕೆ ಕರ್ತರೆಂಬರಯ್ಯಾ, ಎಡೆ ಬಿಡಾರದ ಘನವನೆತ್ತಬಲ್ಲರೊ ?
ಆದಿ ಅನಾದಿಯಿಲ್ಲದಂದು ಶೂನ್ಯ ನಿಶ್ಶೂನ್ಯವಿಲ್ಲದಂದು
ನಾದ ಬಿಂದು ಕಳೆ ಹುಟ್ಟದಂದು ಬ್ರಹ್ಮವಿಷ್ಣ್ವಾದಿಗಳಿಲ್ಲದಂದು
ಅಷ್ಟದಿಕ್ಕು ನವಖಂಡಗಳಿಲ್ಲದಂದು

ನಿರಾಳ ನಿಶ್ಶೂನ್ಯ ನಿರ್ಭೇದ್ಯವಾದ ಪರಮಚಿತ್ಕಲೆಯೆಂಬ ಕೋಣದಲ್ಲಿಪ್ಪ
ಪರಮಾಮೃತವನು ಸುಯಿಧಾನವೆಂಬ ಹಸ್ತದಿಂದ
ಸುಜ್ಞಾನವೆಂಬ ಗಿಣಿಲಿನಲ್ಲಿ ಗಡಣಿಸಿಕೊಂಡು
ನಿರ್ಮಳ ಸದ್ಭಾವ ಹಸ್ತದಿಂದ ಚಿನ್ಮಯ ಮಹಾಲಿಂಗಕ್ಕರ್ಪಿಸಿ
ಚಿದ್ಘನಪ್ರಸಾದವ ಸವಿದು
ಅಸಂಖ್ಯಾತ ಬ್ರಹ್ಮಾಂಡ ಪಿಂಡಾಂಡದೊಳಗೆ ಪರಿಪೂರ್ಣವಾಗಿ
ತನ್ನ ನಿಲವ ತಾನರಿಯ ಬಲ್ಲಡೆ ಎಡೆಬಿಡಾರಕ್ಕೆ ಕರ್ತನೆಂಬೆನಯ್ಯಾ.
ಹಾಂಗಲ್ಲದೆ; ಹೊನ್ನಿಂಗೆ ಮಣ್ಣಿಂಗೆ ಹೆಣ್ಣಿಂಗೆ ಕೂಳಿಂಗೆ
ಮಣ್ಣಮನೆ, ದೇಗುಲಕೆ ಹೊಡೆದಾಡಿ
ಭವಾಂಬುಧಿಯಲ್ಲಿ ತೇಂಕಾಡುವಂಥ ಕುನ್ನಿಮಾನವರು
ಎಡೆಬಿಡಾರಕ್ಕೆ ಸಲ್ಲರು ಕಾಣಾ ಗುಹೇಶ್ವರಾ. ॥೨೭೯॥

೯೭೪

ಎತ್ತೆತ್ತ ನೋಡಿದಡೆ ಬಸವಣ್ಣನೆಂಬ ಬಳ್ಳಿ,
ಆ ಬಳ್ಳಿಯ ಹಿಡಿದೆತ್ತಿದಡೆ ಲಿಂಗವೆಂಬ ಗೊಂಚಲು.
ಆ ಲಿಂಗದ ಗೊಂಚಲ ಹಿಡಿದೆತ್ತಿದಡೆ, ಭಕ್ತಿರಸಮಯವಾಯಿತ್ತಯ್ಯಾ.
ಇದಾರಯ್ಯಾ ಅಮಳೋಕ್ಯವ ಮಾಡಬಲ್ಲವರು ?
ಇದಾರಯ್ಯಾ ಹೊರಗೆ ಪ್ರಜ್ವಲಿಸಿ ತೋರಬಲ್ಲವರು ?
ಬಸವಗುರು [ವೆ] ಎನ್ನ ಕರಸ್ಥಲದ ಲಿಂಗದ
ಆದಿಯನರುಹಿ ತೋರಿದ ಕಾರಣ,
ಗುಹೇಶ್ವರಲಿಂಗದ ನಿಲವ ನಿನ್ನಿಂದಲರಿದೆ,
ಈ ಲೋಕಾದಿಲೋಕಂಗಳೆಲ್ಲವು
ಎನ್ನ ಮುಖದಲ್ಲಿ ಕಿಂಚಿತ್ತು. ॥೨೮೦॥

೯೭೫

ಎನ್ನಂಗದಲ್ಲಿ ನಿಮಗೆ ಮಜ್ಜನ,
ಎನ್ನ ತುರುಬಿನಲ್ಲಿ ನಿಮಗೆ ಕುಸುಮ ಪೂಜೆ
ಎನ್ನ ನೇತ್ರದಲ್ಲಿ ನಿಮಗೆ ನಾನಾರೂಪು ವಿಚಿತ್ರ ನೋಟ.
ಎನ್ನ ಶ್ರೋತ್ರದಲ್ಲಿ ನಿಮಗೆ ಪಂಚ ಮಹಾವಾದ್ಯದ ಕೇಳಿಕೆ.
ಎನ್ನ ನಾಸಿಕದಲ್ಲಿ ನಿಮಗೆ ಸುಗಂಧ ಧೂಪ ಪರಿಮಳ.
ಎನ್ನ ಜಿಹ್ವೆಯಲ್ಲಿ ನಿಮಗೆ ಷಡುರಸಾನ್ನ ನೈವೇದ್ಯ.

ಎನ್ನ ತ್ವಕ್ಕಿನಲ್ಲಿ ನಿಮಗೆ ವಸ್ತ್ರಾಭರಣಾಲಂಕಾರ ಪೂಜೆ.
ಎನ್ನ ಆನಂದವೆಂಬ ಸೆಜ್ಜೆಗ್ರಹದಲ್ಲಿ ನೀವು ಸ್ಪರುಷನಂಗೈದು ನೆರೆದಿಪ್ಪರಾಗಿ.
ನಾನು ನೀನೆಂಬೆರಡಳಿದು. ತಾನು ತಾನಾದ
ಘನವನೇನೆಂಬೆ ಗುಹೇಶ್ವರಯ್ಯಾ. ॥೨೮೧॥

೯೭೬

ಎನ್ನಂತರಂಗವೆಂಬ ಭೂಮಿಯಲ್ಲಿ
ಮಹಾಜ್ಞಾನವೆಂಬ ನಿಧಾನ ಭೂಗತವಾಗಿದ್ದಿತ್ತಯ್ಯಾ.
ಶ್ರೀಗುರುವೆಂಬ ಅಂಜನಸಿದ್ಧನು ಬಂದು.
ಎನ್ನ ಅದಕ್ಕೆ ಬಲಿಯನಿಕ್ಕಿ.
ತನ್ನ ಕರುಣಾಮೃತವೆಂಬ ಮರುಜವಣಿಯ ಹಿಂಡಿ
ಆ ನಿಧಾನವನೆನಗೆ ಕರತಳಾಮಳಕವ ಮಾಡಿಕೊಟ್ಟನಯ್ಯಾ.
ಗುಹೇಶ್ವರಾ–ನಿಮ್ಮ ಶರಣ ಅನಿಮಿಷನೆಂಬ ಶ್ರೀಗುರು. ॥೨೮೨॥

೯೭೭

ಎನ್ನ ಕರಸ್ಥಲದ ಲಿಂಗದೊಳಗೆ
ಒಂದು ಮಹಾಬೆಳಗ ಕಂಡೆನಯ್ಯಾ !
ಮಹಾ ಮಂಗಳನಿಳಯವಾಗಿ ತೋರುತ್ತಿದೆ !
ಗುಹೇಶ್ವರನೆಂಬ ಲಿಂಗದ ಕಂಗಳ ಕಾಂತಿಗಳು
ಸಂಗನಬಸವಣ್ಣನ ನಿವಾಳಿಸುತ್ತಿದ್ದವಯ್ಯಾ ! ॥೨೮೩॥

೯೭೮

ಎನ್ನ ಕಾಯವ ಬಸವಣ್ಣನಳವಡಿಸಿಕೊಂಡ.
ಎನ್ನ ಮನವ ಚನ್ನಬಸವಣ್ಣನಳವಡಿಸಿಕೊಂಡ.
ಎನ್ನ ಭಾವವ ಮಡಿವಾಳಯ್ಯನಳವಡಿಸಿಕೊಂಡ.–
ಇಂತೀ ಮೂವರು ಒಂದೊಂದನಳವಡಿಸಿಕೊಂಡ ಕಾರಣ
ಗುಹೇಶ್ವರಾ. ನಿಮ್ಮ ಶರಣರೆಂಬ ತ್ರಿಮೂರ್ತಿಗಳಿಗೆ
ನಮೋ ನಮೋ ಎನುತಿರ್ದೆನು. ॥೨೮೪॥

೯೭೯

ಎನ್ನ ಕಾಯವೆಂಬ ಸಿಂಹಾಸನದಲ್ಲಿ
ಪ್ರಾಣವೆಂಬ ಲಿಂಗವ ಮೂರ್ತಗೊಳಿಸಿ.

ಧ್ಯಾನವೆಂಬ ಹಸ್ತದಲ್ಲಿ ಮುಚ್ಚಿ ಪೂಜಿಸುತಿರಲು,
ಮೆಲ್ಲಮೆಲ್ಲನೆ ಸುತ್ತಿ ಮುತ್ತಿದ ಸಂಸಾರ, ಬಯಲ ಬೆರಸಿ.
ನಾ ನೀನೆಂಬ ಭೇದವಳಿದು,
ಮಹಾದಾನಿ ಗುಹೇಶ್ವರನ ನೋಡಲಾಗಿ ನಿಜಲಿಂಗವಾಯಿತ್ತು. ॥೨೮೫॥

೯೮೦

ಎನ್ನ ತನುವೆ ಚನ್ನಬಸವಣ್ಣನಯ್ಯಾ, ಎನ್ನ ಮನವೆ ಮಡಿವಾಳನಯ್ಯಾ,
ಎನ್ನ ಪ್ರಾಣವೆ ಸಂಗನಬಸವಣ್ಣನಯ್ಯಾ,
ಗುಹೇಶ್ವರಾ—ನಿಮ್ಮ ಶರಣರ ಘನವನು
ಎನ್ನ ಸರ್ವಾಂಗದಲ್ಲಿ ಕಂಡು ಪರಮಸುಖಿಯಾಗಿರ್ದೆನು. ॥೨೮೬॥

೯೮೧

ಎನ್ನ ಮನದ ಮರವೆ ಭಿನ್ನವಾಗದು.
ಮರೆದು ಅರಿದೆನೆಂದಡೆ ಅರುಹಿನ ಮರವೆಯ ಮಧ್ಯದಲ್ಲಿ ಎಡೆದೆರಪಿಲ್ಲ.
ಕೋಲಿನಲ್ಲಿ ನೀರ ಹೊಯ್ದರೆ ಸೀಳಿ ಹೋಳಾದುದುಂಟೆ ?
ಅರಿವುದೊಂದು ಘಟ. ಮರೆವುದೊಂದು ಘಟ. ಒಡಗೂಡುವ ಠಾವಿನ್ನೆಂತೋ.
ಹುತ್ತದ ಬಾಯಿ ಹಲವಾದಡೆ ಸರ್ಪನೈದುವಲ್ಲಿ ಒಡಲೊಂದೆ ತಪ್ಪದು.
ತನ್ನ ಚಿತ್ತದ ಭೇದವಲ್ಲದೆ ವಸ್ತುವಿಂಗೆ ಭೇದವುಂಟೆ [ಗುಹೇಶ್ವರ] ॥೨೮೭॥

೯೮೨

ಎನ್ನ ಹೃದಯಕಮಲ ಮಧ್ಯದಲ್ಲಿ
ಮೂರ್ತಿಗೊಂಡಿಪ್ಪ ಎನ್ನ ಪ್ರಾಣೇಶ್ವರಂಗೆ—
ಎನ್ನ ಕ್ಷಮೆಯೆ ಅಭಿಷೇಕ. ಎನ್ನ ಪರಮವೈರಾಗ್ಯವೆ ಪುಷ್ಪದಮಾಲೆ
ಎನ್ನ ಸಮಾಧಿಸಂಪತ್ತೆ ಗಂಧ. ಎನ್ನ ನಿರಹಂಕಾರವೆ ಅಕ್ಷತೆ.
ಎನ್ನ ಸದ್ವಿವೇಕವೆ ವಸ್ತ್ರ. ಎನ್ನ ಸತ್ಯವೆ ದಿವ್ಯಾಭರಣ
ಎನ್ನ ವಿಶ್ವಾಸವೆ ಧೂಪ. ಎನ್ನ ದಿವ್ಯಜ್ಞಾನವೆ ದೀಪ.
ಎನ್ನ ನಿಭ್ರಾಂತಿಯೆ ನೈವೇದ್ಯ. ಎನ್ನ ನಿರ್ವಿಷಯವೆ ತಾಂಬೂಲ
ಎನ್ನ ಮೌನವೆ ಘಂಟೆ. ಎನ್ನ ನಿರ್ವಿಕಲ್ಪತೆಯೆ ಪ್ರದಕ್ಷಿಣೆ.
ಎನ್ನ ಶುದ್ಧಿಯೆ ನಮಸ್ಕಾರ.
ಎನ್ನ ಅಂತಃಕರಣದಿಂದ ಮಾಡುವ ಸೇವೆಯೆ ಉಪಚಾರಂಗಳು—
ಈ ಪರಿಯಲ್ಲಿ ಎಮ್ಮ ಗುಹೇಶ್ವರಲಿಂಗಕ್ಕೆ ಪ್ರಾಣ (ಲಿಂಗ) ಪೂಜೆಯ ಮಾಡಿ
ಬಾಹ್ಯಕ್ರೀಯ ಮರೆದನು ಕಾಣಾ ಸಂಗನಬಸವಣ್ಣಾ. ॥೨೮೮॥

೯೮೩

ಎರಡು ಒಂದಾದ ಬಳಿಕ ಅರ್ಚನೆ ಹಿಂಗಿತ್ತು.
ಎರಡು ಒಂದಾದ ಬಳಿಕ ಅರ್ಪಿತ ಹಿಂಗಿತ್ತು.
ಎರಡು ಒಂದಾದ ಬಳಿಕ ಆಚಾರ ಹಿಂಗಿತ್ತು.
ಎರಡು ಒಂದಾದ ಬಳಿಕ ಅವಧಾನ ಹಿಂಗಿತ್ತು.
ಎರಡು ಒಂದಾದ ಬಳಿಕ ಶಬ್ದಕ್ಕೆ ಇಂಬಿಲ್ಲ
ರೂಹಿಸಲೆಡೆಯುಂಟೆ ಗುಹೇಶ್ವರಾ ? ॥೨೮೯॥

೯೮೪

ಎರಡು ಕಣ್ಣುಳ್ಳಡೆ ಚತುರ್ಭುಜನೆಂಬೆನು.
ಮೂರು ಕಣ್ಣುಳ್ಳಡೆ ಮಹೇಶ್ವರನೆಂಬೆನು
ಮೈಯೆಲ್ಲಾ ಕಣ್ಣಾದಡೆ ಸದಾಶಿವನೆಂಬೆನು
(ಹದಿನೈದು ಕಣ್ಣಾದಡೆ ಪರಶಿವನೆಂಬೆನು?)
ಗುಹೇಶ್ವರಾ ನಿಮ್ಮ ಶರಣಂಗೆ ಅಂಗಾಲ ಕಣ್ಣು ಮೂಡಿದಡೆ
ನಿರುಪಮ ಮಹಿಮ ಅಲ್ಲಯ್ಯನೆಂಬೆನು. ॥೨೯೦॥

೯೮೫

ಎರಡು ನೇತ್ರ ಒಂದಾದ ಭಾಳನೇತ್ರವು ಇಷ್ಟಲಿಂಗದ ಗೋಳಕಕ್ಕೆ ಕೂಟವು.
ಒಂದು ಲಿಂಗ ಎರಡಾದುದೆ ಇಷ್ಟ ಪ್ರಾಣಲಿಂಗವು.
ಆ ಪ್ರಾಣಲಿಂಗದ ಹಸ್ತಂಗಳಿಗೆರಡು ನೇತ್ರಂಗಳೆ ಕುಚಂಗಳು,
ಆ ಕುಚಂಗಳು ಹಿಡಿಯಲಿಕೆ,
ಈ ಕುಚವೆರಡು ಗುಹ್ಯ ಒಂದು ಕೂಡಿ ತ್ರಿಕೂಟವೆಂಬ ಹೆಸರಾಯಿತ್ತು.
ಆ ತ್ರಿಕೂಟವೆಂಬ ಶಾಂಭವಪುರದ ಮಧ್ಯದಲ್ಲಿ
ಜ್ಯೋತಿರ್ಲಿಂಗವೇಕವಾದ ಬಳಿಕ,
ತನುತ್ರಯದ ವಿಕಾರವ ಹೊದ್ದಲಾಗದು.
ವಿಕಾರವ ಹೊದ್ದಿದರೆ ಮೀಸಲೋಗರವ ಶುನಿಮುಟ್ಟಿದಂತಾಯಿತ್ತು
ಆ ಜೀವಾತ್ಮಪದಾರ್ಥವು ಲಿಂಗಕ್ಕೆ ಸಲ್ಲದು,
ಅವರ ತೆರನೆಂತಾಯಿತ್ತೆಂದಡೆ ;
ಜನ್ಮದಾರಿದ್ರನು ನಿಕ್ಷೇಪವಂ ಕಂಡು ಹೋಗಲಾಗಿ ದಿಗಿಲುಬಿದ್ದು ಸತ್ತಂತಾಯಿತ್ತು.
ಅಂಥ ನಿರ್ಭಾಗ್ಯ ದುರ್ಮರಣನ ಕಂಡು ಹೇಸಿ,
ತಮ್ಮ ತನುತ್ರಯವಿಕಾರಮಂ ಪೊರ್ದದೆ,
ಲಿಂಗ ನಿಕ್ಷೇಪದಲ್ಲಿ ನಿರಂಗವಾಗಿ, ಮನ್ಮಥರತಿಯೆಂಬ ನರಕವ ಬೀಳದೆ,
ಅಕ್ಷಯಸುಖಿಗಳಾದರು ನೋಡಾ ಗುಹೇಶ್ವರಲಿಂಗದಲ್ಲಿ. ॥೨೯೧॥

೯೮೬

ಎರಡು ಬೆಟ್ಟದ ನಡುವೆ ಕರಡಿಯ ಮಿಳಿಯ ಮಾಡಿ,
ಹುಲಿಯನೂ ಎತ್ತನೂ ಹೂಡಿ ಹೊಡೆದವರಾರೊ ?
ಎರಡರ ಎಂಟೆರಡರ, ಆರರ (ಆರೆಡರ?), ನಾಲ್ಕೆರಡರ
ಶರಧಿ ಶರಧಿಯ ಕೂಡಿ ಮೊರೆವುದಿದೇನೊ ?
ಕುರುಡ ಹೆಳವನ ಕೈವಿಡಿದು ನಡೆವಂತೆ,
ಗುಹೇಶ್ವರನೆಂಬ ಲಿಂಗನಿರಾಳದ ನಿಲುವು. ॥೨೯೨॥

೯೮೭

ಎರಡು ಬೆಟ್ಟದ ನಡುವೆ ಹಳ್ಳವ ಮಿಳಿಯ ಮಾಡಿ,
ಬಾವಿಯನುತ್ತೆನೆಂಬ ಮರುಳತನವ ನೋಡಾ !
ತೊರೆಯ ಮೇಲೆ ಮಾರುಗೋಲನಿಕ್ಕಿ
ಹುಟ್ಟು ಮುರಿದು ಹೋದ ಅಂಬಿಗನ ನೋಡಾ.
ಮರೆದು ಮಲಗಿದ ಬೆಕ್ಕಿನ ಕಿವಿಯ ಇಲಿ ಮೇದಂತೆ
ಗುಹೇಶ್ವರನೆಂಬ ಲಿಂಗ ನಿರಾಳದ ನಿಲವು. ॥೨೯೩॥

೯೮೮

ಎರಡೆಂಬತ್ತು ಕೋಟಿ ಗೀತವ ಹಾಡಿದರೇನಯ್ಯಾ ?
ಬೆಟ್ಟಕ್ಕೆ ನಾಯಿ ಬೊಗಳಿದಂತಾಯಿತ್ತಯ್ಯಾ.
ಮನವು ಘನವ ನೆಮ್ಮದು, ಘನವು ಮನವ ನೆಮ್ಮದು.
ಹಾಡಿದರೇನು ಓದಿದರೇನು ?
ಗುಹೇಶ್ವರ ನೀನೊಲಿದ ಕಾಲಕ್ಕೆ
ಎರಡೆಂಬತ್ತು ಕೋಟಿ ಗೀತವೆಲ್ಲವೂ
ನಿಮ್ಮದೊಂದು ಮಾತಿನೊಳಡಕವಯ್ಯಾ. ॥೨೯೪॥

೯೮೯

ಎರಡೊಂದು ಮುಕ್ಕೂಟದೊಳು ಲಿಂಗದೆಡೆಯಾಟವಿರಲು,
ಬೀಜಕ್ಷೇತ್ರದೆರಕ ಹರಿಹರಯೋಗ.
ವಿರತರತಿ ನಿಕ್ಷೇಪವಿದುವೆ ಗರ್ಭಾದಾನ.
ಪರಮಬೀಜಾವಾಪವಿದರ ಫಲನಿರ್ವಾಣ !
ಸರಸಲಿಂಗದ ನಿಷೇಕವನರಿವುದೆ ಸಾಜ,
ಗುರುವೆ ಕರುಣಿಸಿದ ಶಿವಲಿಂಗಕಮಲಾರ್ಚನೆಯನು.
ಇದು ಗುಹ್ಯ ಗುಹೇಶ್ವರಾ. ॥೨೯೫॥

೯೯೦

ಎಲೆ ಬಸವಣ್ಣ ನಾವು ಬಹುದಕ್ಕೆ ಮುನ್ನವೆ
ಬಂದಹರೆಂದು ಶುಭಸೂಚನೆ ತೋರಿತ್ತೆಂದೆ.
ಮನೆಯ ಮೀರಿ ಮಂದದ ದೈವ ಉಂಟೆ ಎಂಬುದ ತಿಳಿ,
ಗುಹೇಶ್ವರಲಿಂಗದಲ್ಲಿ ಸಂಗನಬಸವಣ್ಣಾ. ॥೨೯೬॥

೯೯೧

ಎಲೆ ಮನವೆ,
ಎಲ್ಲಿ ಹವಣಿಸಬಾರದ ಅಖಂಡ ಬೆಳಗು ತೋರುತ್ತಿಹುದು
ಅದೀಗ ನಿನ್ನ ನಿಜ.
ಎಲೆ ಮನವೆ,
ಆವಲ್ಲಿ ನೀನೆಂಬ ಶಂಕೆ ಹಿಂಗಿ ತಾನೆ ತೋರುತ್ತಿಹುದು
ಅದೀಗ ನಿನ್ನ ನಿಜ.
ಎಲೆ ಮನವೆ,
ನಿನ್ನ ನಿಜವನರಿಯಬಲ್ಲಡೆ ಅದೇ ಬ್ರಹ್ಮಜ್ಞಾನ, ಅದೇ ಕೇವಲಮುಕ್ತಿ,
ಅದೇ ನಮ್ಮ ಗುಹೇಶ್ವರಲಿಂಗವನರಿವ
ಸಹಜಭಕ್ತಿಯ ಕುಳ ಕಾಣಾ:
ಎಲೆ ಮನವೆ-ನೀನಿದ ನಿಶ್ಚಯಿಸಿಕೊ ಮರೆಯದೆ. ॥೨೯೭॥

೯೯೨

ಎಲೆ ಮನವೆ; ನೀ ನಿನ್ನ ನಿಜವ ತಿಳಿವಡೆ
ಆ ನಿನ್ನ ನಿಜವ ಹೇಳುವೆ ಕೇಳು:
ಅದು ಕೇವಲ ಜ್ಯೋತಿ ಅದು ವರ್ಣಾತೀತ.
ನೀನದನರಸುವಾಗ ನಿನಗಾವಲ್ಲಿ ನಿಶ್ಚಯ ತೋರಿತ್ತು,
ಅದೀಗ ನಿನ್ನ ಪರಿಪೂರ್ಣತ್ವದ ನೆಲೆ.
ಆ ನಿನ್ನ ನಿಜವ ನಿಶ್ಚಯಿಸಿ ನೀ ನಿರ್ಗಮನಿಯಾದಲ್ಲಿ
ಅದೇ ನಿನ್ನ ಸಮ್ಯಕ್‌ಜ್ಞಾನದ ತೋರಿಕೆ !
ಆ ತೋರಿಕೆಯ ಅಖಂಡ ಬೆಳಗಿನ ಹೊಳಹಿನೊಳಗೆ
ನೀ ನಮ್ಮ ಗುಹೇಶ್ವರಲಿಂಗದ ಶ್ರೀಚರಣವನರಸಿಕೊಂಡು
ನಿಶ್ಚಿಂತನಾಗೆಲೆ ಮನವೆ. ॥೨೯೮॥

೯೯೩

ಎಲೆಯಿಲ್ಲದ ವೃಕ್ಷ ಉಲಿಯಬಲ್ಲುದೆ ?
ಜಲವಿಲ್ಲದ ತಟಾಕ ತೆರೆಗೊಡಲುಂಟೆ ?
ಶಬ್ದಮುಗ್ಧವಾದವಂಗೆ, ನುಡಿಗೆಡೆಯುಂಟೆ ?
ಸಮಯವ ಸಾಧಿಸುವನ್ನಬರ ಎಂತು ನಿಜನಿಃಪತಿಯಪ್ಪುದು ?
ಭ್ರಾಂತುಮರ್ಕಟನ ವೃಶ್ಚಿಕ ಹೊಯಿದಂತೆ
ನಮ್ಮ ಗುಹೇಶ್ವರಲಿಂಗದಲ್ಲಿ
ಮರೆದಾಡಬೇಡವೆಲೆ ಭ್ರಾಂತುಯೋಗಿ ಘಟ್ಟಿವಾಳಯ್ಯ. ॥೨೯೯॥

೯೯೪

ಎಲ್ಲರಂತೆ ನುಡಿದು ಎಲ್ಲರಂತೆ ನಡೆದು
ಎಲ್ಲರಂತೆ ಸಂಸಾರವ ಬಳಸುತ್ತಿಪ್ಪರೆಂದು
ಎಲ್ಲರಂತೆ ಕಾಣಬಹುದೆ ನಿಜ ದೊರೆಕೊಂಡ ನಿರ್ಮಲಜ್ಞಾನಿಗಳ ?
ಅವರ ಮನೋಮಧ್ಯದಲ್ಲಿ ತೊಳಗಿ ಬೆಳಗುವ ಶಿವಜ್ಞಾನಬೀಜವು ಹೊಳ್ಳಪ್ಪುದೆ ?
ಉರಿಯದಿದ್ದಡೂ ಕಿಚ್ಚನೊರಲೆ ಕೊಂಬುದೆ ಗುಹೇಶ್ವರಾ ? ॥೩೦೦॥

೯೯೫

ಎಲ್ಲಿಯೂ ಇಲ್ಲೆಂಬುದ ಹುಸಿ ಮಾಡಿ,
ಶಿಲಾಲಿಖಿತವು ಗುರುವಿನ ವಶವಾಗಿ,
ಅಲ್ಲಲ್ಲಿಗೆ ಉಂಟೆಂಬುದನು ನಿಲ್ಲದೆ ತೋರಿ,
ಮಾಡಿದನು ಶಿಷ್ಯ – ತಾನು ಬಲ್ಲಿದ !
ಷಡುವಿಧದ ಜವನಿಕೆಯ ಮರೆಯಲ್ಲಿಯೆ
ಗುಹೇಶ್ವರಲಿಂಗದ ಅರಿವು ! ॥೩೦೧॥

೯೯೬

ಎಳ್ಳಿಂಗೆ ಪರಿಮಳವ ಕಟ್ಟಿದಲ್ಲದೆ,
ಎಣ್ಣೆಗೆ ಪರಿಮಳ ವೇಧಿಸದು (ಘಟಿಸದು?)
ದೇಹದಲ್ಲಿ ಇಷ್ಟಲಿಂಗ ಸ್ಥಾಪಿಸಿದಲ್ಲದೆ ಪ್ರಾಣಲಿಂಗ ಸಂಬಂಧವಾಗದು.
ಇದು ಕಾರಣ ನಮ್ಮ ಗುಹೇಶ್ವರಲಿಂಗದಲ್ಲಿ
ಇಷ್ಟಲಿಂಗ ಸಂಬಂಧಿಯಾದಲ್ಲದೆ, ಪ್ರಾಣಲಿಂಗ ಸಂಬಂಧಿಯಾಗಬಾರದು, –
ಕಾಣಾ ಸಿದ್ಧರಾಮಯ್ಯಾ. ॥೩೦೨॥

೯೯೭

ಏನ ಕಂಡಡೇನಯ್ಯಾ, ತನ್ನ ಕಾಣದಾತ ಕುರುಡ.
ಏನ ಕೇಳಿದಡೇನಯ್ಯಾ ತನ್ನ ಕೇಳದಾತ ಕಿವುಡ.
ಏನ ಮಾತಾಡಿದಡೇನಯ್ಯಾ ತನ್ನ ಮಾತಾಡದಾತ ಮೂಕ.
ದಿಟದಿಂತ ತನ್ನ ತಾ ಕಾಣಬೇಕು, ದಿಟದಿಂದ ತನ್ನ ತಾ ಕೇಳಬೇಕು,
ದಿಟದಿಂದ ತನ್ನ ತಾ ಮಾತಾಡಬೇಕು.
ಇದೆ ತನ್ನ ನೆಲೆ, ಸ್ವಭೂಮಿ, ಸ್ವಸ್ವರೂಪು ಕಾಣಾ—ಗುಹೇಶ್ವರಾ. ॥೩೦೩॥

೯೯೮

ಏನೂ ಇಲ್ಲದ ಠಾವಿನಲ್ಲಿ ನಾ ನೀನೆಂಬುದ ತಾನೆ ತಂದನು.
ಇಲ್ಲಾದುದ ಉಂಟಾದುದ ಸಾವಿರವನಾಡಿದಡೇನು ?
ಉಂಟಾದುದನು 'ಇಲ್ಲ' ಮಾಡಬಲ್ಲಡೆ
ಆ 'ಇಲ್ಲ'ವೆ ತಾನೆ ಗುಹೇಶ್ವರ ! ॥೩೦೪॥

೯೯೯

ಏನೂ ಎನಲಿಲ್ಲದ ಮಹಾಘನದೊಳಗೆ,
ತಾನೆಂಬುದನಳಿದ ಪರಮಲಿಂಗೈಕ್ಯಂಗೆ,
ಧ್ಯಾನ ಮೌನದ ಹಂಗುಂಟೆ ಗುಹೇಶ್ವರಾ. ॥೩೦೫॥

೧೦೦೦

ಏನೂ ಏನೂ ಇಲ್ಲದ ಬಯಲೊಳಗೊಂದು
ಬಗೆಗೊಳಗಾದ ಬಣ್ಣ ತಲೆದೋರಿತ್ತು.
ಆ ಬಣ್ಣವು ಆ ಬಯಲ ಶೃಂಗರಿಸಲು,
ಬಯಲು ಸ್ವರೂಪಗೊಂಡಿತ್ತು.
ಅಂತಪ್ಪ ಸ್ವರೂಪಿನ ಬೆಡಗು ತಾನೆ,
ನಮ್ಮ ಗುಹೇಶ್ವರಲಿಂಗದ ಪ್ರಥಮ ಭಿತ್ತಿ. ॥೩೦೬॥

೧೦೦೧

ಐದ ಕಟ್ಟಿ ಐದ ನೆಗಪಿ,
ಮನಪವನಧ್ಯಾನ ಭಾವ ದೃಢದಿಂದ
ಧ್ಯಾನದಿ ನೋಡಿ; ಕಾಯದ ಗಾಳಿಯ ಸಂಚವ ಶೋಧಿಸಿ,

ಒಳಗೆ ಜಾರಿದ ಅಮೃತವನು
ವಾಯುಮಂಡಲದಲೆತ್ತಿ, ನಾಭಿಮಂಡಲದಲ್ಲಿ ನುಂಗಿ
ಮಾಯಾಮಂಡಲ ತೋರಲರಿಯ ಬಲ್ಲಡೆ
ಗುಹೇಶ್ವರಲಿಂಗದಲ್ಲಿ ಆತ ಶಿವಯೋಗಿ. ॥೩೦೭॥

೧೦೦೨

ಐದರ ಮಧ್ಯದ ಕಣ್ಣ ಕಾಡಿನೊಳಗೆ ಬಿದ್ದಿದಾವೆ ಈರೈದು ಹೆಣನು
ಬೆಂಬಳುವರು ಬಳಗ ಘನವಾದ ಕಾರಣ
ಆ ಹೆಣನು ಬೇಯವು, ಕಾಡೂ ನಂದದು
ಮಾಡು ಉರಿಯಿತ್ತು ಗುಹೇಶ್ವರಾ. ॥೩೦೮॥

೧೦೦೩

ಐದಾನೆಯ ಬೆನ್ನಲ್ಲಿ ಐದು ಒಂಟೆ ಹೋದವು,
ಒಂಬತ್ತು ಸಾವಿರ ಕುದುರೆಯನು ಒಂದು ಎಳಗ ಎಯ್ದಿ ಸುತ್ತಿದ್ದಿತ್ತು.
ಅರೆಮರುಳಾದವನ ನೆರೆ ಮರುಳಾದವ ಬಲ್ಲನೆ ?
ಕುರುಬ ಕುರಿಯ ಹಾಲ ಕರೆದು ಒಲೆಯ ಮೇಲಿಕ್ಕೆ,
ಇಕ್ಕಿದ ಹಾಲ ಬೆಕ್ಕು ಕುಡಿಯಿತ್ತು,
ಬೆಣ್ಣೆಯ ಮುಂದಿಟ್ಟುಕೊಂಡಳುತಿರ್ದ ಕಾಣಾ ಗುಹೇಶ್ವರಾ. ॥೩೦೯॥

೧೦೦೪

ಐದಿಂದ್ರಿಯವನರಿತಲ್ಲದೆ, ಒಂದಿಂದ್ರಿಯಕ್ಕೆ ಸಂದ ಗುಣವನರಿಯಬಾರದು.
ಆ ಗುಣ ಏಕಮೂರ್ತಿ ತ್ರಿವಿಧರೂಪಾದ ಕಾರಣ.
ಪೂಜೆಯೆಂಬುದ ಪುಣ್ಯವೆಂಬ ಭಾವವಿಲ್ಲದೆ ಮಾಡಿದಡೆ
ನಮ್ಮ ಗುಹೇಶ್ವರಲಿಂಗಕ್ಕೆ ಅನ್ಯವಿಲ್ಲ ಕಾಣಾ ಚಂದಯ್ಯ. ॥೩೧೦॥

೧೦೦೫

ಒಂದಡಕೆಯನಿಟ್ಟರೆ ಅಡ್ಡಗೋಡೆ ಬಸುರಾಯಿತ್ತು,
ನಡುಮನೆಯೊಳಗಣ ಕಂಭ ಗಂಡು ಮಗನ ಹಡೆಯಿತ್ತು.
ಹೊರಗೆ ಕಿಚ್ಚನಿಕ್ಕಿ ಒಳಗೆ ಅಗ್ನಿ ಪುಟವ ಹಾಕಿ,
ಹಾದಿ ಹೋಗೋ ಅಣ್ಣ ನಮ್ಮ ಕರುವ ಕಾಣಲಿಲ್ಲವೆ.

ನಿನ್ನೆ ಬಿತ್ತಿದ ಹೊಲದಾಗೆ ಮೊನ್ನೆ ಮೇಯ್ವುದ ಕಂಡೆ.
ಕೊರಳ ಕೊಯ್ವುದ ಕಂಡೆ, ರಕ್ತವ ಕಾಣಲಿಲ್ಲ,
ಸುಡುವುದ ಕಂಡೆ ಬೂದಿಯ ಕಾಣಲಿಲ್ಲ.
ಇಷ್ಟ ಕಂಡು ಬೆರಗಾದ ನಮ್ಮ ಗುಹೇಶ್ವರಾ. ॥೩೧೧॥

೧೦೦೬

ಒಂದ ಮಾಡ ಹೋದಡೆ ಮತ್ತೊಂದಾಯಿತ್ತೆಂಬ ಮಾತು
ದಿಟವಾಯಿತ್ತು ನೋಡಾ.
ನಿಮ್ಮ ಒಡತಣ ಅನುಭಾವದಿಂದ
ಗುರುಮುಖ ಸಾಧ್ಯವಾದುದಯ್ಯಾ,
ಗುಹೇಶ್ವರಲಿಂಗದಲ್ಲಿ ನಿನಗೂ ನನಗೂ
ಉಪದೇಶವ ಒಂದಾದ ಭೇದವ ಹೇಳಾ ಚನ್ನಬಸವಣ್ಣಾ. ॥೩೧೨॥

೧೦೦೭

ಒಂದ ಮಾಡಹೋದಡೆ ಮತ್ತೊಂದಾಯಿತ್ತೆಂಬುದು,
ಎನಗಾಯಿತ್ತು ನೋಡಾ ಬಸವಣ್ಣಾ
ಮಡಿವಾಳನ ಪೂರ್ವಾಪರವನೊರೆದು ನೋಡಿದಡೆ
ನಿನ್ನ ಪೂರ್ವಾಪರ ಎನಗೆ ಅರಿಯ ಬಂದಿತ್ತು ನೋಡಾ ಬಸವಣ್ಣಾ.
ನಿನ್ನ ಪೂರ್ವಾಪರಸಂಗವ ಮಾಡಬಂದಡೆ
ಎನ್ನ ಪೂರ್ವಾಪರ ಎನಗೆ ಅರಿಯ ಬಂದಿತ್ತು ನೋಡಾ ಬಸವಣ್ಣಾ.
ಮಹಾಜ್ಞಾನಿಗಳ ಸಂಗದಿಂದ ಉಭಯ ಸಂಗಸಿದ್ಧಿಯೆಂಬುದು
ದಿಟವಾಯಿತ್ತು ನೋಡಾ ಬಸವಣ್ಣಾ.
ಗುಹೇಶ್ವರನ ಶರಣ ಮಡಿವಾಳ ಮಾಚಿತಂದೆಗಳ ಶ್ರೀಪಾದಕ್ಕೆ
ನಮೋ ನಮೋ ಎಂದು ಬದುಕಿದೆನು ಕಾಣಾ ಸಂಗನಬಸವಣ್ಣಾ. ॥೩೧೩॥

೧೦೦೮

ಒಂದಾದುದು ಎರಡಪ್ಪುದೆ ? ಎರಡಾದುದು ಒಂದಪ್ಪುದೆ – [ಎಂದು]
ಪರಿಣಾಮದ ವೇಳೆಯಲ್ಲಿ ಸಂದೇಹ ಹುಟ್ಟಲುಂಟೆ ?
ಬಂದ ಜಂಗಮದ ನಿಲವನರಿಯದೆ,
ಹಿಂದನೆಣಿಸಿ ಹಲವ ಹಂಬಲಿಸುವರೆ ?

ಈ ಒಂದು ನಿಲವಿಂಗೆ ಪರಿಣಾಮವ ಮಾಡಬಲ್ಲಡೆ
ನಿನ್ನ ಲಕ್ಷದ ಮೇಲೆ ತೊಂಬತ್ತಾರುಸಾವಿರ ಜಂಗಮಕ್ಕೆ
ಪರಿಣಾಮವಹುದು ನೋಡಾ.
ಗುಹೇಶ್ವರನೆಂಬ ಲಿಂಗದ ನಿಲವನರಿಯದೆ
ಮರುಳಾದೆಯಲ್ಲಾ ಸಂಗನಬಸವಣ್ಣಾ. ॥೩೧೪॥

೧೦೦೯

ಒಂದು ದಿಕ್ಕಿನಲ್ಲಿ ಕತ್ತಲೆಯನಿರಿಸಿ,
ಒಂದು ದಿಕ್ಕಿನಲ್ಲಿ ತನುವನಿರಿಸಿ,
ಒಂದು ದಿಕ್ಕಿನಲ್ಲಿ ವಚನವನಿರಿಸಿ,
ಒಂದು ದಿಕ್ಕಿನಲ್ಲಿ ರುಚಿಯನಿರಿಸಿ,
ನಾಲ್ಕು ದಿಕ್ಕಿನ ನಡುವೆ ನೀನಿರಬಲ್ಲಡೆ,
ಎನ್ನ ಬೆಸಗೊಳ್ಳಯ್ಯಾ ಗುಹೇಶ್ವರಾ. ॥೩೧೫॥

೧೦೧೦

ಒಂದು ಧನುವಿಂಗೆ ಮೂರಂಬ ಹಿಡಿದೆ.
ಒಂದು ಬಾಣವ ಬಿಡಲಾಗಿ ಪದ್ಮೋದ್ಭವನ ಸೃಷ್ಟಿಯ ಕಟ್ಟಿತ್ತು,
ಮತ್ತೊಂದು ಬಾಣವ ಬಿಡಲಾಗಿ ಪದ್ಮೋದ್ಭವನ ಹೆಡಗಯ್ಯ ಕಟ್ಟಿತ್ತು.
ಕಡೆಯ ಬಾಣವು ರುದ್ರನ ಹಣೆಯನೊಡೆದು ಅಲಗು ಮುರಿಯಿತ್ತು.
ನಾರಿ ಜಾರಿತ್ತು, ನಾರಿಯ ಹೂಳುವ ಹಿಳಿಕು ಹೋಳಾಯಿತ್ತು.
ಗುಹೇಶ್ವರನ ಶರಣ ಅಲ್ಲಮ ಹಿಡಿದ ಬಿಲ್ಲು ಮುರಿಯಿತ್ತು. ॥೩೧೬॥

೧೦೧೧

ಒಂದು ಪಟ್ಟಣದೊಳಗೆ ಛಪ್ಪನ್ನ ಗೃಹಕ್ಕೆ ಒಂದೆ ಕೀಲಾಗಿ,
ಆ ಕೀಲಿನ ಸಕೀಲವನಾರಿಗೂ ಕಾಣಬಾರದೆಂದೂ—
ಭಾವಿಸಿ ಕಂಡರು ಒಂದೆ ಮನದವರು.
ಉಳಿದವರೆಲ್ಲ ಆ ಕೀಲಿನೊಳಗಾಗಿ ಜೀವ ಜೀರ್ಣವಾಯಿತ್ತು.
ಹದಿನೆಂಟು ಸ್ಥಾನದ ಕೀಲಗಳ ಸಂಗವನಳಿದು, ಸುಸಂಗವಾಗಿ
ಶೃಂಗಾರ ಭೃಂಗಾರವಾಗದೆ ಒಂದು ಮುಖದಲ್ಲಿ ನಿಂದು
ಗುಹೇಶ್ವರಾ—ನಿಮ್ಮ ಶರಣ ಚನ್ನಬಸವಣ್ಣ ಹೊರಗಾದ ! ॥೩೧೭॥

೧೦೧೨

ಒಂದು ಮನ;
ಆ ಮನದಲ್ಲಿ ಲಿಂಗತ್ರಯವನು ಒಂದೆ ಬಾರಿ [ಗೆ] ನೆನೆವ ಪರಿಯೆಂತೊ ?
ಅರಿದರಿದು ಲಿಂಗಜಾಣಿಕೆ !
ಮುಂದ ನೆನೆದಡೆ ಹಿಂದಿಲ್ಲ; ಹಿಂದ ನೆನೆದಡೆ ಮುಂದಿಲ್ಲ.
ಒಂದರೊಳಗೆ ಎರಡೆರಡಿಪ್ಪವೆಂದಡೆ,
ಅದು ಭಾವಭ್ರಮೆಯಲ್ಲದೆ ಸಹಜವಲ್ಲ.
ನಿರುಪಾಧಿಕಲಿಂಗವನುಪಾಧಿಗೆ ತರಬಹುದೆ ?
ಸ್ವತಂತ್ರಲಿಂಗವ ಪರತಂತ್ರಕ್ಕೆ ತರಬಹುದೆ ?
ಗುಹೇಶ್ವರಾ—ನಿಮ್ಮ ಬೆಡಗು ಬಿನ್ನಾಣವನರಿದೆನಾಗಿ,
ಎಂತಿರ್ದುದಂತೆ ಸಂತ ! ॥೩೧೮॥

೧೦೧೩

ಒಂದು ಮುಳ್ಳ ಮೊನೆಯ ಮೇಲೆ ಎಂಬತ್ನಾಲ್ಕು ಲಕ್ಷ ಪಟ್ಟಣವ ಕಟ್ಟಿ.
ಈ ಎಂಬತ್ನಾಲ್ಕು ಲಕ್ಷ ಪಟ್ಟಣಕ್ಕೆ ತಲೆಯಿಲ್ಲದ ತಳವಾರ,
ಆ ತಲೆಯಿಲ್ಲದ ತಳವಾರನ ತಂಗಿ ಮಾತಿನಲಿ ಕಡುಜಾಣೆ.
ಆಕೆ ಸರ್ಪನ ಸಿಂಬೆಯ ಮಾಡಿಕೊಂಡು ತಳವಿಲ್ಲದ ಕೊಡನ ತಕ್ಕೊಂಡು
ಜಲವಿಲ್ಲದ ಬಾವಿಗೆ ನೀರಿಗೆ ಹೋದಳು.
ಆ ಜಲವಿಲ್ಲದ ಬಾವಿಯೊಳೊಂದು ಬೇರಿಲ್ಲದ ಸಸಿ ಪುಟ್ಟಿತ್ತು.
ಆ ಬೇರಿಲ್ಲದ ಸಸಿ ವೃಕ್ಷವಾಗಿರಲಾವೃಕ್ಷವ ಕಾಲಿಲ್ಲದ ಮೃಗ ಏರಿ ಹೋಗುತ್ತಿತ್ತು.
ಅದ ಕಣ್ಣಿಲ್ಲದ ಕುರುಡ ಕಂಡ.
ಕೈಯಿಲ್ಲದ ಪುರುಷ ಹೆದೆಯಿಲ್ಲದ ಬಿಲ್ಲ ಪಿಡಿದು.
ಅಲಗಿಲ್ಲದಂಬಿನಲ್ಲೆಸೆಯಲಾ ಮೃಗವ ತಾಕಲಿಲ್ಲ.
ಅದರ ಹೊಟ್ಟೆಯೊಳಗಿರ್ದ ಪಿಂಡಕ್ಕೆ ತಾಕಿತ್ತು.
ಇದ ಕಂಡು ಬೆರಗಾದ ನಮ್ಮ ಗುಹೇಶ್ವರ. ॥೩೧೯॥

೧೦೧೪

ಒಂದೆಂಬೆನೆ ? ಎರಡಾಗಿದೆ; ಎರಡೆಂಬೆನೆ ? ಒಂದಾಗಿದೆ.
ಒಂದೆರಡೆಂಬ ಸಂದೇಹವಿದೇನೊ ?
ಅಗಲಲಿಲ್ಲದ ಕೂಟಕ್ಕೆ ಬಿಚ್ಚಿ ಬೇರಾಗದ ಉಪದೇಶ !
ಗುರು ಶಿಷ್ಯರೆಂಬ ಭಾವಕ್ಕೆ ಭೇದವುಂಟೆ ಗುಹೇಶ್ವರಾ ? ॥೩೨೦॥

೧೧೧೫

ಒಂದೆರಡರ ಮೂರು ನಾಲ್ಕರ ಪರಿವಿಡಿಯ ಭಾವವನರಿಯದೆ
ಕೆಟ್ಟಿತ್ತು ನೋಡಾ ಲೋಕ, ಕೆಟ್ಟಿತ್ತು ನೋಡಾ ಜಗವು
ಕೆಟ್ಟಿತ್ತು ನೋಡಾ ಈರೇಳು ಭುವನವೆಲ್ಲವು
ಇತ್ತ ವಿಸ್ತಾರವಾಯಿತ್ತು, ಸ್ಥಿತಿ ಆಯತವಾಯಿತ್ತು
ಮಾರಾರಿ ಕಟ್ಟಳೆ ವಿಪರೀತವು ನೋಡಾ
ನಾದ ಚಕ್ರಂಗಳ, ಬಿಂದು ಚಕ್ರಂಗಳ, ಕಲಾ ಚಕ್ರಂಗಳ
ನಿಲ್ಲೆಂದು ನಿಲಿಸಿದ ನಿರ್ವಾಯ ಚೆನ್ನಬಸವಣ್ಣನು
ಕಾಲಕರ್ಮ ಸ್ಥಿತಿಗುಣವನತಿಗಳೆದು ನಿರ್ಭಾವದಲ್ಲಿ ನಿರ್ವಾಯ ಚೆನ್ನಬಸವಣ್ಣನು
ತನ್ನಲ್ಲಿ ತಾನು ಬೆಳಗಾದ ಚೆನ್ನಬಸವಣ್ಣನು
ಬೆಳಗಪ್ಪ ಬೆಳಗು ಲೀಯವಾಯಿತು ಗುಹೇಶ್ವರಾ
ಚೆನ್ನಬಸವಣ್ಣನು ||೩೨೧||

೧೧೧೬

ಒಂದೆರಡಾದುದನಾರೂ ಅರಿಯರು:
ಆ 'ಒಂದು' ಒಂದೆ ಆಯಿತ್ತು, ತ್ರಿತತ್ವವಾಯಿತ್ತು, ವೇದಾತೀತವಾಯಿತ್ತು.
ಭರಿತವಾಯಿತ್ತು, ಪ್ರಾದೇಶಿಕವಾಯಿತ್ತು, ಭಕ್ತಿಗೆ ಸಾಧ್ಯವಾಯಿತ್ತು.
ಅದಕ್ಕೆ ಆಧಾರ ದೇಹವಾಯಿತ್ತು.
ಅದು ಅಷ್ಟವಿಗ್ರಹ ಸ್ವರೂಪವಾಗಿರುತ್ತಿಪ್ಪುದು.
ಮತ್ತಿರುತಿರ್ದ ಒಂದು ಮಾಯಾಶಕ್ತಿಯಂ ಕೂಡಿ,
ಗುಣತ್ರಯಂಗಳಂ ಕೂಡಿ, ನಾನಾತ್ಮನೆನಿಸಿಕೊಂಡು –
ವಿಷಯಾತ್ಮ ಇಂದ್ರಿಯಾತ್ಮ ಭೂತಾತ್ಮ ಜೀವಾತ್ಮ ಪರಮಾತ್ಮನೆನಿಸಿಕೊಂಡು,
ಪ್ರಾಣಾದಿವಾಯುಗಳಂ ಕೂಡಿಕೊಂಡು ಜಡಪ್ರಕೃತಿಗಳಂ ಹೊತ್ತುಕೊಂಡು
ಸಂಕಲ್ಪ – ವಿಕಲ್ಪವೆಂಬ ಉಭಯ ಕರ್ಮಂಗಳಂ ಕಲ್ಪಿಸಿ
ನಾನಾಯೋನಿ ಪ್ರಾಪ್ತವಾಗುತ್ತಿರ್ದು,
ಲೋಕಾದಿಲೋಕಂಗಳೊಳು ತೊಳಲಿ ಬಳಲಿ
ತನ್ನ ಮೊದಲ ಕೂಡುವ ಪ್ರಕಾರಮಂ ಬಯಸಿ
ನಾನಾ ವಿಧದಿಂದ ಅರಸಿ ಹರಿವುತ್ತಿಪ್ಪರು ಅಖಿಳ ಜೀವಿಗಳೆಲ್ಲರು.
ಇದ ಬೆರಸದೆ: ಬೆರಸಿದ ಸಂಗನಬಸವಣ್ಣನ ನೆನೆನೆನೆದು
ಶರಣೆಂದು ಶುದ್ಧನಾದೆನು ಕಾಣಾ ಗುಹೇಶ್ವರಾ. ||೩೨೨||

೧೦೧೭

ಒಂದೆರಡಾದುದ ಬಲ್ಲವರಾರೊ ?
ಎರಡರೊಳಗಣ ಮೂರ ಬಲ್ಲವರಾರೊ ?
ಮೂರರ ಮುಖವನರಿದು ಕೂಡಿ ಮಾಡಬಲ್ಲವರಾರೊ ?
ಗುಹೇಶ್ವರಲಿಂಗದಲ್ಲಿ ಸಂಗನಬಸವಣ್ಣನೊಬ್ಬನೆ. ||೩೨೩||

೧೦೧೮

ಒಂದೆರಡೆಂಬ ಸಂದೇಹಕ್ಕೊಳಗಾದವರೆಲ್ಲರೂ
ಬಂದರು ನೋಡಾ ನಾನಾ ಭವದಲ್ಲಿ.
ಕುಂದು ಹೆಚ್ಚಿನ ಹೋರಾಟದಿಂದ ಬಂಧನಕ್ಕೆ ಸಿಕ್ಕಿದರಲ್ಲ !
ಒಂದೆರಡನೊಳಕೊಂಡು ನಿಂದ ನಿಲವ,
ಸಂದಿಲ್ಲದೆ ಹೊಂದಿಪ್ಪ ಗುಹೇಶ್ವರ ತನ್ನಲ್ಲಿ. ||೩೨೪||

೧೦೧೯

ಒಂಬತ್ತು ಒಟ್ಟೆ ನೆರೆದು ಮೂರು ತತ್ತಿಯನಿಕ್ಕಿತ್ತ ಕಂಡೆ
ಆನೆ ಆಡಹೋದರೊಂದು ಚಿಕ್ಕಾಡು ನುಂಗಿತ್ತ ಕಂಡೆ
ನಾರಿಯಾಡಹೋದಲ್ಲಿ ಒಂದು ಚಂದ್ರಮತಿಯ ಕಂಡೆನು
ಪೃಥ್ವೀ ಮಂಡಲವನೊಂದು ನೊಣ ನುಂಗಿತ್ತು ನೋಡಾ
ಗುಹೇಶ್ವರನೆಂಬ ಲಿಂಗವ ಕಂಡವರುಳ್ಳರೆ ಹೇಳಿರೆ. ||೩೨೫||

೧೦೨೦

ಒಕ್ಕುದು ಪ್ರಸಾದವೆಂಬರು, ಮಿಕ್ಕುದು ಪ್ರಸಾದವೆಂಬರು
ಒಕ್ಕುದು ಮಿಕ್ಕುದನೆಲ್ಲ ಬೆಕ್ಕು ಕೊಳ್ಳದೆ ?
ಒಕ್ಕುಮಿಕ್ಕು ಹೋಗುವ ಪಂಚಸಕೀಲವ ಬಲ್ಲಡೆ
ಗುಹೇಶ್ವರಲಿಂಗದಲ್ಲಿ ಆತನೆ ಪ್ರಸಾದಿ. ||೩೨೬||

೧೦೨೧

ಒಡಲಡಗ ಮಚ್ಚಿದಾತನ ಅಚ್ಚ ಶರಣನೆಂಬೆ.
ಮಡಿಲಡಗ ಮಚ್ಚಿದಾತನ ಅಚ್ಚ ಲಿಂಗವಂತನೆಂಬೆ.
(ಈ ಒಡಲಡಗು ಮಡಿಲಡಗಿನೊಳಗೆ ಒಂದ ಮಚ್ಚದಿದ್ದರೆ ?)
ಉತ್ಪತ್ತಿ ಪ್ರಳಯ ತಪ್ಪದು.

ಶ್ರೀಗುರು ಮಹಾಲಿಂಗದಲ್ಲಿ ಒಡಲಡಗ ಮಚ್ಚಿ
ಅಚ್ಚಭವಿಯಾದ ಶರಣನೊಬ್ಬನೆ – ಗುಹೇಶ್ವರ. ||೩೨೭||

೧೦೨೨

ಒಡಲುಗೊಂಡ ಮಾನವರೆಲ್ಲರು ನೀವು ಕೇಳಿರೆ,
ಬಿಡದೆ ಕಾಡುವುದು ವಿಧಿ ಮೂರುಲೋಕವನೆಲ್ಲ.
ಒಡಲು ಒಡವೆಯನು ಒಲ್ಲೆನೆಂಬವರುಗಳಿಗೆ
ತೊಡರನಿಕ್ಕಿತ್ತು ಮಾಯೆ.
ಆರುದರ್ಶನಕ್ಕೆಲ್ಲ ಮಡದಿ ಮಕ್ಕಳನೊಲ್ಲೆನೆಂಬ ಹಿರಿಯರಿಗೆಲ್ಲ
ತೊಡರನಿಕ್ಕಿತ್ತು ಮಾಯೆ.
ಮೃಡ ಮೊದಲಾದ ಹರಿ ವಿರಿಂಚಿಗಳನೆಲ್ಲರನು
ಕೋಡಗದಾಟವ ಆಡಿಸಿತ್ತು,
ಗುಹೇಶ್ವರಾ ನಿಮ್ಮ ಮಾಯೆ. ||೩೨೮||

೧೦೨೩

ಒಡಲೊಳಗಿದ್ದು ಒಡಲಿಂಗಾಧಾರವಾಗಿ ಒಡಲ ಸೋಂಕದೆ,
ಒಡಲ ಬೆಳಗುವ ಪರಿಯ ನೋಡಾ !
ಬೆಳಗಿಂಗೆ ಬೆಳಗಾಗಿ ಬೆಳಗುವ ಪರಿಯ ನೋಡಾ !
ಪರಮಚೈತನ್ಯ ನಿರಾಳ ಗುಹೇಶ್ವರಲಿಂಗವ ನೋಡಾ ! ||೩೨೯||

೧೦೨೪

ಒಳಗ ತೊಳೆದು ಜಲವ ತುಂಬಲರಿಯದ ಅರೆಮರುಳನೇನಾದ ಹೇಳಿರೆ ?
ಜಲದ ಸಂಗವ ತೊರೆಯಲರಿಯದೆ ಜಲವ ಬಯಸುವನೆಂತಿರ್ದ ಹೇಳಿರೆ ?
ನೆಲನ ಶೋಧಿಸಿ ನೆಲೆಯನರಿಯದೆ,
ಕೆರೆಯ ಕಟ್ಟಿಸುವ ಒಡ್ಡ ರಾಮನ ಇರವೆಂತು ಹೇಳಿರೆ ?
ನಮ್ಮ ಗುಹೇಶ್ವರನ ನಿಲವನರಿಯದ ಮರುಳ
ಸಿದ್ಧರಾಮನೆಂತಿರ್ದಹ ಹೇಳಿರೆ ? ||೩೩೦||

೧೦೨೫

ಒಳಗೆ ಪ್ರಾಣಲಿಂಗ, ಹೊರಗೆ ಕಾಯಲಿಂಗ
ಮನಕ್ಕೆ ಮನ ನಾಚದಿದೇನೊ ?
ಎರಡರ ನಿರಿಗೆಯ ಒಂದೆಂದರಿದಡೆ
ಅದೇ ಪಥವಯ್ಯಾ ಗುಹೇಶ್ವರಾ. ||೩೩೧||

೧೦೨೬

'ಓಂ' ಎಂದು ವೇದವನೋದುವ ಮಾದಿಗಂಗೆ ಸಾಧ್ಯವಾಗದು ವಿಭೂತಿ.
ಪುರಾಣವನೋದುವ ಪುಂಡರಿಗೆ ಸಾಧ್ಯವಗದು ವಿಭೂತಿ
ಶಾಸ್ತ್ರವನೋದುವ ಸಂತೆಯ ಸೂಳೆಮಕ್ಕಳಿಗೆ ಸಾಧ್ಯವಾಗದು ವಿಭೂತಿ
ಅಂಗಲಿಂಗಸಂಬಂಧವನರಿದ ಶಿವಜ್ಞಾನಿಗಳಿಗಲ್ಲದೆ ಸಾಧ್ಯವಾಗದು ವಿಭೂತಿ.
ಅಂಗೈಯೊಳಗೆ ವಿಭೂತಿಯನಿರಿಸಿಕೊಂಡು,
ಅಗ್ಘಣಿಯ ನೀಡಿ ಗುಣಮರ್ದನೆಯ ಮಾಡಿ
ಲಿಂಗ ಉಚ್ಛಿಷ್ಟನಂಗೈದು ? ಲಿಂಗ ಸಮರ್ಪಣಂಗೈದು,
ಷಡಕ್ಷರಿಯ ಸ್ಮರಣೆಯಂಗೈದು
ಭಾಳದೊಳು ಪಟ್ಟವಂ ಕಟ್ಟಿ, ವಿಭೂತಿಯ ಧಾರಣಂಗೈದು
ಹಸ್ತವ ಪ್ರಕ್ಷಾಲಿಸುವವ ಗುರುದ್ರೋಹಿ ಲಿಂಗದ್ರೋಹಿ ಜಂಗಮದ್ರೋಹಿ.
ಶ್ರೀವಿಭೂತಿಯ ಲಲಾಟಕ್ಕೆ ಧರಿಸಿ ಹಸ್ತವ ತೊಳೆವ
ಪಾತಕರ ಮುಖವ ನೋಡಲಾಗದು.
ಶ್ರೀವಿಭೂತಿಯನು ಶಿವನೆಂದು ಧರಿಸುವುದು, ಪರಶಿವನು ತಾನೆಂದು ಧರಿಸುವುದು.
ಸಾಕ್ಷಿ: ಕೃತ್ವೇವ ಜಲಮಿಶ್ರಂತು ಸಮುಧೃತ್ಯಷಡಕ್ಷರಿ
ಧಾರಯೇತ್ ತ್ರಿಪುಂಡ್ರಂತು ಮಂತ್ರೇಣ ಮಂತ್ರಿತಂ"
ಶ್ರೀವಿಭೂತಿಯ ಧರಿಸಿ ಹಸ್ತವ ತೊಳದಾತಂಗೆ
ದೇವಲೋಕ ಮರ್ತ್ಯಲೋಕಕ್ಕೆ ಸಲ್ಲದೆಂದುದಾಗಿ
ನಿಮ್ಮಾಣೆ ನಿಮ್ಮ ಪ್ರಮಥರಾಣೆ,
ನಮ್ಮ ಗುಹೇಶ್ವರಲಿಂಗವು ತಾನಾದ ವಿಭೂತಿ ಕಾಣಾ ಸಂಗನಬಸವಣ್ಣ. ॥೩೩೨॥

೧೦೨೭

'ಓಂ ನಮಃ ಶಿವಾಯ' ಎಂಬ ದೇವನಿರಲು
ಒಡಲುವಿಡಿದು ಪಾಷಾಣಕ್ಕೆ ಹಂಗಿಗರಾದಿರೆ.
ಶರೀರ, ಶರೀರ ರೂಹಿಸಿದ ರೂಹಿಂಗೆ ಮಾಯದ ಬಲೆಯಲ್ಲಿ ಸಿಲುಕಿ
ಅಂಗಸಂಗಿಗಳೆಲ್ಲರು ಮಹಾಘನವನರಿಯದೆ ಹೋದಿರೆ.
ಹುಸಿಯನೆ ಕೊಯ್ದು ಹುಸಿಯನೆ ಪೂಜಿಸೆ–
ನೇಮದೊಳಗಿದು ಸಲ್ಲದು.
ಗುಹೇಶ್ವರಾ, ನಿಮ್ಮ ಶರಣರ ಸಂಬಂಧ
ತೋರದು ತೋರದು ಬಹುಮುಖಿಗಳಿಗೆ ! ॥೩೩೩॥

೧೦೨೮

ಓಂ ನಮಃ ಶಿವಾಯಯೆಂಬುದನರಿಯದೆ
ಜಗವೆಲ್ಲವು ನಾಯಾ[ಯಿತ್ತು].
ತಮ್ಮ ತಾವರಿಯದವರಿಗೆ, ಇನ್ನು ಹೇಳಿ ಕೇಳಿದಂತೆ ಆಚರಿಸದಿರ್ದಡೆ
ಆ ನಾಯ ಸಾವು ತಪ್ಪದು.
ಇನ್ನೆತ್ತಣ ಮುಕ್ತಿ ? ಅವರಿಗೆ ಭೋಧಿಸಿದ್ದಾ[ಗದು]
ಕಾಣಾ ಗುಹೇಶ್ವರಾ. ॥೩೩೪॥

೧೦೨೯

ಓಟೆ ಇದ್ದಂತೆ ಕಾಯಿ ಮೆದ್ದವರುಂಟೆ ?
ಕಾಯದ ಗುಣವಿದ್ದಂತೆ ಲಿಂಗವನರಿದವರುಂಟೆ ?
ಜೋಡು ಹರಿದಲ್ಲದೆ ಕಾಯವನಿರಿಯಲರಿಯದು ಕೈದು.
ಆ ಭಾವವ ತಿಳಿದಲ್ಲದೆ ನಮ್ಮ ಗುಹೇಶ್ವರಲಿಂಗವನರಿಯಬಾರದು
ಕಾಣಾ, ಎಲೆ ಅಂಬಿಗರ ಚೌಡಯ್ಯ. ॥೩೩೫॥

೧೦೩೦

ಓಡಿನಲೂಟ ಕಾಡಿನಲಾಟ – ವಿಪರೀತ ಚರಿತ್ರ !
ಮರುಳಿನ ಕೂಟ !
ಕೋವಿದ ಕೋವಿದ ಅವಿದ ಅವಿದ ಲಿಂಗ
ಗುಹೇಶ್ವರನೆಂಬಾತನೊಬ್ಬನೆ ಹೊರಗು,
ಉಳಿದವರೆಲ್ಲರೂ ಸೂತಕರಯ್ಯಾ. ॥೩೩೬॥

೧೦೩೧

ಓದಿ ಓದಿ ವೇದ ವಾದಕ್ಕಕ್ಕಿತ್ತು.
ಕೇಳೀ ಕೇಳಿ ಶಾಸ್ತ್ರ ಸಂದೇಹಕ್ಕಕ್ಕಿತ್ತು.
ಅರಿದೆ ಅರಿದೆನೆಂದು ಆಗಮ ಅಗಲಕ್ಕೆ ಹರಿಯಿತ್ತು.
ನೀನೆತ್ತ ನಾನೆತ್ತಲೆಂದು –
ಬೊಮ್ಮ ಬಕ್ಕಟ ಬಯಲು ಗುಹೇಶ್ವರಾ. ॥೩೩೭॥

೧೦೩೨

ಓಹೋ ನಮಃ ಶಿವಾಯ, –
ಮಹದಾಕಾಶದ ಮರೆಯಲ್ಲಿರ್ದ ಶಾಂತ್ಯರ್ಕನ ನಿಲವೊ !

ದಶಮರುತನ ಹೊಯಿಲಿಲ್ಲದೆ,
ತಾನೆ ಲಿಂಗದ ಜ್ಞಾನಜ್ಯೋತಿಯ ನಿಲವೊ !
ತನ್ನಿಂದ ತಾನಾಗಿ ಮುಕ್ತಿಯೆ ಕರಿಗೊಂಡ
ಮುಕ್ತಿಯ ಮುತ್ತಿನ ಧವಳಕಾಂತಿಯ ನಿಲವೊ !
ರುದ್ರಾಕ್ಷಿಯ ಹಂಗು ಬೇಡವೆಂದು
ಹೊದ್ದ ಚರ್ಮದ ಹೊದಿಕೆಯಂ ತೆಗೆದ
ಗಿಟಿ ಗಿಟಿ ಜಂತ್ರದ ನಿಲವೊ !
ಅಲ್ಲ, ತನ್ನ ನಿಲವನರಿಯದೆ ವಾದಿಸುತ್ತಿರಲು
ಉರಿಲಿಂಗೋದ್ಭವವಾದ ಉರಿಲಿಂಗದ ನಿಲವೋ !
ಆವ ನಿಲವೆಂದರಿಯಬಾರದು !
ಗುಹೇಶ್ವರನ ಕಂಗಳಿಗೆ ಒಂದಾಶ್ಚರ್ಯ ತೋರಿತ್ತು
ಕಾಣಾ ಸಂಗನಬಸವಣ್ಣಾ ! ॥೩೩೮॥

೧೦೩೩

ಕಂಗಳ ಮುಂದಣ ಗೊತ್ತನರಿದು,
ಕಾಮ್ಯದ ಮುಂದಣ ಚಿತ್ತವ ಹರಿದು,
ಮಾಡಿಹೆನೆಂಬ ಮಾಟಕೂಟದ ಚಿತ್ತ ನಿಂದಲ್ಲದೆ ಸ್ವಸ್ಥವಿಲ್ಲ.
ಹಾಂಗಲ್ಲದೆ ಗುಹೇಶ್ವರಲಿಂಗವ ಕಾಣಬಾರದು–
ಆಯ್ದಕ್ಕಿಯ ಮಾರಯ್ಯಾ. ॥೩೩೯॥

೧೦೩೪

ಕಂಗಳಲ್ಲಿ ಜ್ಯೋತಿರ್ಲಿಂಗ, ಕೈಯಲ್ಲಿ ಉಭಯ ಪ್ರತಿಷ್ಠೆಯ ಲಿಂಗ,
ಬ್ರಹ್ಮರಂಧ್ರದಲ್ಲಿ ಅಮೃತಲಿಂಗ ಉಂಟೆಂಬ
ತ್ರಿವಿಧ ಸಂದನಳಿಯಬೇಕು; ಸಿದ್ಧರಾಮಯ್ಯಾ,
ಗುಹೇಶ್ವರಲಿಂಗವನರಿಯಬೇಕು. ॥೩೪೦॥

೧೦೩೫

ಕಂಗಳ ಸೂತಕ ಕಾಮಿಸಲಾಗಿ ಹರಿಯಿತ್ತು.
ಮನದ ಸೂತಕ ಮುಟ್ಟಲಾಗಿ ಬಿಟ್ಟಿತ್ತು.
ನಾನೆಂಬ ಭಾವ ಗುಹೇಶ್ವರಲಿಂಗದಲ್ಲಿ ಐಕ್ಯವಾಯಿತ್ತು ! ॥೩೪೧॥

೧೦೩೬

ಕಂಗಳೊಳಗಣ ಕಟ್ಟಿಗೆಯ ಮುರಿಯದ,
ಕೈಯೊಳಗಣ ಕಪ್ಪರವನೊಡೆಯದ,

ತನ್ನೊಳಗಿಪ್ಪ ನಿಕ್ಷೇಪವ ಭೇದಿಸಿ ಕಾಣಲರಿಯದ ಬಿನುಗರೆಲ್ಲ,
ಹಲುಗಿರಿವುತ್ತಿಹರು ಕಾಣಾ ಗುಹೇಶ್ವರಾ. ॥೩೪೨॥

೧೦೩೭

ಕಂಡುದೆಲ್ಲ ಪಾವನ ಕೇಳಿತ್ತೆಲ್ಲ ಪರಮಬೋಧೆ,
ಮುಟ್ಟಿತ್ತೆಲ್ಲ ಪರುಷದ ಸೋಂಕು
ಒಡನೆ ನುಡಿದವರೆಲ್ಲ ಸದ್ಯೋನ್ಮುಕ್ತರು.
ಸುಳಿದ ಸುಳುಹೆಲ್ಲ ಜಗತ್ಪಾವನ, ಮೆಟ್ಟಿದ ಧರೆಯೆಲ್ಲ ಅವಿಮುಕ್ತಕ್ಷೇತ್ರ,
ಸೋಂಕಿದ ಜಲವೆಲ್ಲ ಪುಣ್ಯತೀರ್ಥಂಗಳು.
ಶರಣೆಂದು ಭಕ್ತಿಯ ಮಾಡಿದವರೆಲ್ಲರು ಸಾಯುಜ್ಯರು.
ಗುಹೇಶ್ವರಾ ನಿಮ್ಮ ಸುಳುಹಿನ ಸೊಗಸನುಪಮಿಸಬಾರದು. ॥೩೪೩॥

೧೦೩೮

ಕಂಡೆನಲ್ಲಾ ಕರುಳಿಲ್ಲದ ಕಲಿಯ !
ಕಂಡೆನಲ್ಲಾ ಯೌವನವಿಲ್ಲದ ನೇಹವ !
ಕಂಡೆನಲ್ಲಾ ಕೈದುವಿಲ್ಲದ ಕಲಿತನವ !
ಕಂಡೆನಲ್ಲಾ ಕುಸುಮವಿಲ್ಲದ ಗಂಧವ !
ಕಂಡೆನಲ್ಲಾ ಗುಹೇಶ್ವರಲಿಂಗದಲ್ಲಿ
ಮರುಳಶಂಕರನೆಂಬ ನಾಮವ ! ॥೩೪೪॥

೧೦೩೯

ಕಂಡೆನೆಂಬುದು ಕಂಗಳ ಮರವೆ,
ಕಾಣೆನೆಂಬುದು ಮನದ ಮರವೆ,
ಕೂಡಿದೆನೆಂಬುದು ಅರುಹಿನ ಮರವೆ,
ಅಗಲಿದೆನೆಂಬುದು ಮರಹಿನ ಮರವೆ.
ಇಂತು—ಕಂಡೆ ಕಾಣೆ ಕೂಡಿದೆ ಅಗಲಿದೆ ಎಂಬ,
ಭ್ರಾಂತಿಸೂತಕವಳಿದು ನೋಡಲು
ಗುಹೇಶ್ವರಲಿಂಗವನಗಲಲಿಡೆಯಿಲ್ಲ ಕೇಳಾ, ಎಲೆ ತಾಯೆ. ॥೩೪೫॥

೧೦೪೦

ಕಂಡೆಯಾ ಬಸವಣ್ಣಾ,
ಕಣ್ಣೊಳಗಣ ಬೊಂಬೆಯ ಸೂತ್ರದ ಇರವಿನಂತೆ,

ಕುಂದಣದೊಳಗಡೆಗೆ ತೋರುವ ಮೃದು ಛಾಯದಂತೆ,
ನವನೀತದೊಳಗಡಗಿದ ಸಾರದ ಸವಿಯಂತೆ
ಅಂಗವಿಲ್ಲದ ಕುರುಹು, ಭಾವವಿಲ್ಲದ ಬಯಲು,
ಬೆಳಗನರಿಯದ ಜ್ಯೋತಿಯ ಕಂಡೆಯಾ ಸಂಗನಬಸವಣ್ಣಾ,
ಗುಹೇಶ್ವರಲಿಂಗದಲ್ಲಿ ಮರುಳು ಶಂಕರದೇವರ ? ॥೩೪೬॥

೧೦೪೧

ಕಂಬವೊಂದೆ, ದೇಗುಲವೊಂದೆ, ದೇವರೊಂದೆ
ಗುಹೇಶ್ವರ ನಿಮ್ಮ ಮನ್ನಣೆಯ ಶರಣರ ದೇವರೆಂಬೆನು. ॥೩೪೭॥

೧೦೪೨

ಕಟ್ಟಿದಾತ ಭಕ್ತನಪ್ಪನೆ ? ಕೆಡಹಿದಾತ ದ್ರೋಹಿಯಪ್ಪನೆ ?
ಲಿಂಗವ ಕಟ್ಟಲಿಕ್ಕೆ ತನ್ನ ಕೈಯೊಳಗಿಪ್ಪುದೆ ?
ಕೆಡಹಲಿಕ್ಕೆ ಬೀಳಬಲ್ಲುದೆ ?
ಆ ಲಿಂಗವು ಬಿದ್ದ ಬಳಿಕ ಜಗವು ತಾಳಬಲ್ಲುದೆ ?
ಪ್ರಾಣಲಿಂಗ ಬಿದ್ದ ಬಳಿಕ ಆ ಪ್ರಾಣ ಉಳಿಯಬಲ್ಲುದೆ ?
ಲಿಂಗ ಬಿದ್ದಿತ್ತೆಂಬುದು ಸೂತಕದ ಶಬ್ದ, ಭ್ರಾಂತುವಿನ ಪುಂಜ.
ಅಂತು ಅದ ಕೇಳಲಾಗದು.
ಯುಗಜುಗಂಗಳು ಗತವಹವಲ್ಲದೆ ಲಿಂಗಕ್ಕೆ ಗತವುಂಟೆ ?
ಲಿಂಗವು ಬಿದ್ದಿತ್ತೆಂದು ನಿಂದಿಸಿ ನುಡಿವ
ದ್ರೋಹಿಯ ಮಾತ ಕೇಳಲಾಗದು ಕಾಣಾ ಗುಹೇಶ್ವರಾ. ॥೩೪೮॥

೧೦೪೩

ಕಡುಜಲಕ್ಕೆ (ಹರಿವ ಜಲಕ್ಕೆ ?) ಇದಿರಾಗಿ ಹರಿವ ಸ್ವಾಮಿಯ ಬರವ ಕಂಡು,
ಬಿಡದೆ ಬೆಂಬತ್ತಿಸುವ ಪರಿಯ ನೋಡಾ.
ನಡೆ ನುಡಿ ಚೈತನ್ಯ ಒಡಲನೊಂದನು ಮಾಡಿ
ಬಿಡದೆ ವೇಧಿಸುವ ಬೆಡಗ ಕಂಡೆನಯ್ಯಾ !
ಕಡೆಗೆ ಸೂಸದ ದೃಷ್ಟಿ, ಹಿಡಿದು ತೊಲಗದ ಹಸ್ತ,
ಬೇಡ ಬೇಡ ತನಗೆನ್ನದ ಸಜ್ಜನ ಮಡದಿ,
ತನ್ನ ಗಂಡನ ಅಡಗಿ ಕೂಡುವ ಭೇದ !–
ನಡುವಿರುಳು ಕೂಡಿ ನಿಮಿರೆ ಬೆಳಗಾಯಿತ್ತು.

ಮಾಡಿ ನೀಡುವನ ಕಂಡು ನಾಡು ಬೀಡೆಲ್ಲ ನೆರೆದು
ಕೊಡ ಕೈಯಲ್ಲಿ ಕೊಟ್ಟಡೆ ತೃಪ್ತರಾಗಿ,
ಮಾಡುವರು ಹರಸುವರು ನೋಡುವರು ಮನದಣಿಯೆ
ಕೊಡುವರು ಕೋಟಿ, ಸಹಜ ಒಂದೆ ಎಂದು !
ಜೋಡ ತೊಡದಾತನ ಮೈಯಲ್ಲಿ, ಕೂಡೆ ಘಾಯವಿಲ್ಲದುದ ಕಂಡು,
ನೋಡಿರೆ ಮಸೆ ಮುಟ್ಟದ ಮಹಾಂತನ !
ಬೇಡುವೆನು ಕರುಣವನು, ಪಾದ [ವ] ನೊಸಲಲ್ಲಿ ಸೂಡುವೆನು
ಗುಹೇಶ್ವರನ ಶರಣ ಬಸವಣ್ಣಂಗೆ ನಮೋ ನಮೋ ಎಂಬೆನು. ॥೩೪೯॥

೧೦೪೪

ಕಡೆನಾಡಲಿಂಗವ ನಡುನಾಡಿಗೆ ತಂದೆನೆಂಬ ಅಹಂಕಾರವ
ಮುಂದುಗೊಂಡಿದ್ದೆಯಲ್ಲಾ
ಎಂಬತ್ತುನಾಲ್ಕುಲಕ್ಷ ಶಿವಾಲಯವೆಂಬ ಬಯಲಭ್ರಮೆ
ಇದೆಲ್ಲಿಯದು ಹೇಳಾ ?
ಮಹಾಘನಲಿಂಗಕ್ಕೆ ಜಗದ ಜೀವರಾಶಿಗಳು
ಶಿವಾಲಯವಾಗಬಲ್ಲವೆ ?
ನಿನ್ನ ಲಕ್ಷದ ಮೇಲೆ ತೊಂಬತ್ತಾರುಸಾವಿರ ಲಿಂಗವ
ನಿನ್ನ ಎದೆಯಲ್ಲಿ ಇರಿದುಕೊಳ್ಳಾ.
ಗುಹೇಶ್ವರಲಿಂಗವು ನಿನ್ನ ತಪ್ಪಿಸಿ ಹೋದುದ
ಮರೆದೆಯಲ್ಲಾ ಮರುಳ ಸಿದ್ಧರಾಮಯ್ಯಾ. ॥೩೫೦॥

೧೦೪೫

ಕಡೆಯಿಲ್ಲದ ದೇಶವ ತಿರುಗಿದೆನು,
ಹವಣಿಲ್ಲದ ಕಂಥೆಯ ತೊಟ್ಟೆನು,
ಹಸಿವಿಲ್ಲದ ಕಪ್ಪರವ ಹಿಡಿದು ಭಕ್ತಿಭಿಕ್ಷವ ಬೇಡ ಬಂದೆನು.
ಗುಹೇಶ್ವರ ಹಸಿದನು, ಉಣಲಿಕ್ಕು ಏಳಾ ಸಂಗನಬಸವಣ್ಣಾ. ॥೩೫೧॥

೧೦೪೬

ಕಣ್ಣ ಮುಂದಿರ್ದವನ ಕಾಣದೆ ಹೋದೆನು.
ನೋಡೂದ ನೋಡಲರಿಯದೆ ಕೆಟ್ಟಿತ್ತು ಲೋಕವೆಲ್ಲಾ.
ನೋಡೂದ ನೋಡಬಲ್ಲಡೆ ಕೂಡಲಿಲ್ಲ ಅಗಲಲಿಲ್ಲ.

ನೋಡದ ಕೂಡದ ಅಗಲದ ಸುಖವನು
ಗುಹೇಶ್ವರಾ ನಿಮ್ಮ ಶರಣ ಬಲ್ಲನು. ॥೩೫೨॥

೧೦೪೭

ಕಣ್ಣಿಂಗೆ ಕಣ್ಣು. ಕಣ್ಣೊಳು ಕಣ್ಣು. ಕಣ್ಣೇ ನೇತ್ರ.
ನೇತ್ರವೆ ಸೂತ್ರ. ಸೂತ್ರವೆ ಲಿಂಗ, ಲಿಂಗವೆ ಗುಹ್ಯ.
ಗುಹ್ಯಕ್ಕೆ ಗುಹ್ಯ, ಗೋಪ್ಯಕ್ಕೆ ಗೋಪ್ಯ, ರಹಸ್ಯಕ್ಕೆ ರಹಸ್ಯ.
ಈ ನೇತ್ರಮಹಿಮೆಯ ಗುಹೇಶ್ವರ ಬಲ್ಲನಲ್ಲದೆ
ಕಣ್ಣುಗೆಟ್ಟಣ್ಣಗಳೆತ್ತ ಬಲ್ಲರು ನೋಡಯ್ಯ. ॥೩೫೩॥

೧೦೪೮

ಕಣ್ಣೊಳಗಣ ಕಸ. ಕಾಲೊಳಗಣ ಮುಳ್ಳು.
ಮನದೊಳಗಣ ಶಂಕೆ ಹರಿಯಿತ್ತು.
ಗುಹೇಶ್ವರನೆಂಬ ಭಾವ ನಿರಾಳವಾದಲ್ಲಿ ! ॥೩೫೪॥

೧೦೪೯

ಕಣ್ಣು ಕಂಡಲ್ಲದೆ ಮನ ನೆನೆಯದು.
ಆ ಮನ ನೆನೆದಲ್ಲಿಗೆ ಕಾಲು ನಡೆವುದು.
ಕಾಲು ನಡೆದಲ್ಲದೆ ಕಾರ್ಯವಾಗದು.
ಕಾಲಿಂದಡೆ ನೀ ಚರಿಸುವ ವರ್ತನೆ.
ಆ ವರ್ತನಾಚಾರವೆಲ್ಲವು ಲಿಂಗವು.
ಇದು ಕಾರಣ – ಲಿಂಗವ ಹಿಂಗಿದ ಮಾಟ
ಮೀಸಲಿಲ್ಲದ ಮನೆದೇವರ ಹಬ್ಬದಂತೆ !
ನಮ್ಮ ಗುಹೇಶ್ವರಲಿಂಗಕ್ಕೆ.
ಇದೇ ಬೇಹ ಶೌಚ ಕೇಳಾ ಚಂದಯ್ಯಾ. ॥೩೫೫॥

೧೦೫೦

ಕಣ್ಗೆ ಕಾಬಡೆ ರೂಪಲ್ಲ. ಕೈಗೆ ಸಿಲುಕವಡೆ ದೇಹಿಯಲ್ಲ.
ನಡೆವಡೆ ಗಮನಿಯಲ್ಲ. ನುಡಿವಡೆ ವಾಚಾಳನಲ್ಲ.
ನಿಂದಿಸಿದಡೆ ಹಗೆಯಲ್ಲ. ಹೊಗಳಿದವರಿಗೆ ಕೆಳೆಯಲ್ಲ.
ಗುಹೇಶ್ವರನ ನಿಲುವು ಮಾತಿನ ಮಾಲೆಗೆ ಸಿಲುಕುವುದೆ ?
ಸಿದ್ಧರಾಮಯ್ಯ ನೀನು ಮರುಳಾದೆಯಲ್ಲಾ ॥೩೫೬॥

೧೦೫೧

ಕನಕಾಚಲದಲ್ಲಿ ದಿನನಾಯಕ ಎಂಬ ರತ್ನ ಹುಟ್ಟಿ,
ಅಪುದಲ್ಲ (ಅಪುದು ಅಲ್ಲ?) ಎಂಬ ಕೊಳಗದ ಕೊರಳಿನಲ್ಲಿ ಅಳೆವುತ್ತೈದಾನೆ.
ಕೊಳಗದ ಕೊರಳು ತುಂಬಿ ಅಳೆವಾತನ ಹೃದಯ ತುಂಬಿ
ಗುಹೇಶ್ವರಲಿಂಗದ ಕಂಗಳು ತುಂಬಿ ಮಂಗಳಮಯವಾಯಿತ್ತು ! ॥೩೫೭॥

೧೦೫೨

ಕನ್ನಡಿಯೊಳಗಣ ರೂಪನರಸಿಯೂ ಕಾಣರು.
ಹೊಳೆವುತ್ತಿದೆ ಧ್ರುವ (ಭ್ರೂ?) ಮಂಡಲದೊಳಗೆ
ಇದ ಬಲ್ಲವರೊಳಗಿಪ್ಪ ಗುಹೇಶ್ವರ. ॥೩೫೮॥

೧೦೫೩

ಕಬ್ಬಿನ ರಸದೊಳಗಣ ಮುತ್ತನೊಡೆದು ನೋಡಲು
ಹುಬ್ಬಿನ ಮೇಲಣ ನೀಲದ ಪ್ರಭೆಯ ನೋಡಾ !
ವಜ್ರದ ಚಂಡಿಕೆ (ಚಂದ್ರಿಕೆ?)ಯಲ್ಲಿ ಕಟ್ಟಿ ಆಳುವರು !
ಉಭಯ ಕವಿಗಳಿಗೆ ಅರಿಯಬಾರದು.
ಗುಹೇಶ್ವರನ ಸ್ವಾನುಭಾವಿಗಳಿಗಲ್ಲದೆ ತಿಳಿಯಬಾರದು. ॥೩೫೯॥

೧೦೫೪

ಕಬ್ಬು ಬೆಳೆವುದಯ್ಯ ಕರಿಯ ಭೂಮಿಯಿದ್ದಲ್ಲಿ.
ಉಬ್ಬುಬ್ಬಿ ಬೆಳೆವುದಯ್ಯ ಜಲ ಪ್ರಮಾಣವಿರ್ದಲ್ಲಿ.
ದಾರಿದ್ರ್ಯವಿದ್ದಲ್ಲಿ ನಿದ್ರೆ ಬೆಳೆವುದಯ್ಯ.
ನಮ್ಮ ಶಿವನ ಸಲೆ ಸಂದ ಶರಣರಾದ ಹಿರಿಯರಿದ್ದಲ್ಲಿ ಬುದ್ಧಿ ಬೆಳವುದಯ್ಯ.
ಜಟ್ಟಿ ಮಾಸಾಳರಿರ್ದಲ್ಲಿ ಕಾಳಗ ಘನವನಪ್ಪುದಯ್ಯ.
ಇಷ್ಟ ಕಂಡು ಬೆರಗಾದ ನಮ್ಮ ಗುಹೇಶ್ವರ. ॥೩೬೦॥

೧೦೫೫

ಕರ್ಮ ಚರಣಾದಿಗಳು ಬೇರಾದವಲ್ಲದೆ
ಅರಿದು ಮುಟ್ಟುವುದು ಒಂದೆ ಆತ್ಮ.
ಬಿಂದುವಿನ ಒಂದು ಸಾರದಲ್ಲಿ.
ಸಸಿ ಹಲವು ನಾಮ ಬೆಳೆವಂತೆ

ಗುಹೇಶ್ವರಲಿಂಗದಲ್ಲಿ 'ನಾ' 'ನೀ'
ಎಂಬ ಭಾವವಿಲ್ಲ ಸಿದ್ಧರಾಮಯ್ಯಾ. ॥೩೬೧॥

೧೦೫೬

ಕರಸ್ಥಲದ ಬೆಳಗಿನೊಳಗೊಂದು ಘನಲಿಂಗದ ಬೆಳಗ ಕಂಡೆ.
ಮಹಾಮಂಗಳನಿಳಯನಾಗಿ ತೋರುತ್ತಿದ್ದಾನೆ.
ಮಹಾಮಂಗಳನಿಳಯವಾಗಿ ತೋರುತ್ತಿದ್ದಿತ್ತು, ಗುಹೇಶ್ವರಲಿಂಗದ ವಾರ್ತೆ.
ಸಂಗನಬಸವಣ್ಣನ ನಿವಾಳಿಸುತ್ತಿದ್ದಿತ್ತು. ॥೩೬೨॥

೧೦೫೭

ಕರಸ್ಥಲದ ಲಿಂಗ ಮನಸ್ಥಲದಲ್ಲಿ ವೇದ್ಯವಾಗಿ
ಮನಸ್ಥಲದ ಲಿಂಗ ಸರ್ವಾಂಗದಲ್ಲಿ ವೇದ್ಯವಾದ ಬಳಿಕ
ಇನ್ನು ಭಿನ್ನಭಾವಕ್ಕೆ ತೆರಹುಂಟೆ ?
ಗುಹೇಶ್ವರಲಿಂಗವ ಬೆರಸಿ ಸಮರಸವಾದ ಬಳಿಕ
ಎರಡೆಂಬುದಿಲ್ಲ ನೋಡಾ ಚನ್ನಬಸವಣ್ಣಾ. ॥೩೬೩॥

೧೦೫೮

ಕರಸ್ಥಲದ ಲಿಂಗವೆ ಕಾಯಕ್ಕೆ ವೇಧಿಸಿದಲ್ಲಿ, ಕಾಯ ಲಿಂಗವಾಯಿತ್ತು.
ಅಂತಾದ ಮಹಾಘನಲಿಂಗವೆ ಪ್ರಾಣಕ್ಕೆ ವೇಧಿಸಿದಲ್ಲಿ ಪ್ರಾಣ ಲಿಂಗವಾಯಿತ್ತು,
ಅಂತಾದ ಮಹಾಘನಲಿಂಗವೆ ಭಾವಕ್ಕೆ ವೇಧಿಸಿದಲ್ಲಿ ಭಾವ ಲಿಂಗವಾಯಿತ್ತು.
ಅಂತಾದ ಮಹಾಘನಲಿಂಗವೆ ಜ್ಞಾನಕ್ಕೆ ವೇಧಿಸಿದಲ್ಲಿ ಜ್ಞಾನ ಲಿಂಗವಾಯಿತ್ತು.
ಅಂತಾದ ಕಾರಣ–ನಮ್ಮ ಗುಹೇಶ್ವರನ ಶರಣಂಗೆ,
ಅರಿವರತು ಕುರುಹು ನಿಷ್ಪತಿಯಾಗಿ,
ತಾನೆಂಬ ಭಾವವು ಉರಿಯುಂಡ ಕರ್ಪೂರದಂತಾಯಿತ್ತು ! ॥೩೬೪॥

೧೦೫೯

ಕರಿಯು ಸ್ಪರ್ಶನೇಂದ್ರಿಯದಿಂದ ಬಂಧನವಡೆದಳಿಯಿತ್ತು.
ಪತಂಗನು ರೂಪೇಂದ್ರಿಯದಿಂದ ಬಂಧನವಡೆದಳಿಯಿತ್ತು.
ಭೃಂಗನು ಗಂಧೇಂದ್ರಿಯದಿಂದ ಬಂಧನವಡೆದಳಿಯಿತ್ತು.
ಕುರಂಗನು ಶಬ್ದೇಂದ್ರಿಯದಿಂದ ಬಂಧನವಡೆದಳಿಯಿತ್ತು.
ಮತ್ಸ್ಯವು ರಸನೇಂದ್ರಿಯದಿಂದ ಬಂಧನವಡೆದಳಿಯಿತ್ತು.–

ಇಂತೀ; ಒಂದೊಂದು ಇಂದ್ರಿಯೋದ್ರೇಕದಿಂದ
ಒಂದೊಂದು ಪ್ರಾಣಿಯು ಪ್ರಳಯವಾಯಿತ್ತು.
ಪಂಚೇಂದ್ರಿಯಂಗಳ, ಒಂದು ಘಟದಲ್ಲಿ ತಾಳಿಹ ಮನುಷ್ಯ ಪ್ರಾಣಿಗಳಿಗೆ,
ಮರವೆ ಎಡೆಗೊಂಡು ದೇಹಮೋಹಭ್ರಾಂತು ಮುಸುಕಿ
ಮಾಯೆಯ ಬಾಯ ತುತ್ತಹುದು
ಚೋದ್ಯವೇನು ಹೇಳಾ ಗುಹೇಶ್ವರಾ ? ॥೩೬೫॥

೧೦೬೦

ಕರು(ರ?)ಣ ಲಿಂಗಾರ್ಚನೆಯ ಮಾಡಲೆಂದು ಪುಷ್ಪಕ್ಕೆ ಕೈಯ ನೀಡಿದಡೆ
ಆ ಪುಷ್ಪ ಕರಣದೊಳಗಡಗಿತ್ತಯ್ಯ.
ಷೋಡಶ ಕಳೆ ಹದಿನಾರರೆಸಳು ವಿಕಸಿತವಾಯ್ತು.
ಪುರುಷ ಪುಷ್ಪದ ಮರಸು,
ಅದು ಓಗರದ ಗೊಬ್ಬರವನುಣ್ಣದು, ಕಾಮದ ಕಣ್ಣೆರಿಯದು.
ನಿದ್ರೆಯ ಕಪ್ಪೊತ್ತದು.
ಅರುಣ ಚಂದ್ರಾದಿಗಳಿಬ್ಬರ ತೆರೆಯುಂಡು ಬೆಳೆಯದ ಪುಷ್ಪ
ಲಿಂಗವೆ ಧರೆಯಾಗಿ ಬೆಳೆಯಿತ್ತು,
ಆ ಪುಷ್ಪ ನೋಡಾ !
ಆ ಪುಷ್ಪವೆಂದಿಗೂ ನಿರ್ಮಾಲ್ಯವಲ್ಲೆಂದು
ಗುಹೇಶ್ವರ, ನಿಮ್ಮ ಶರಣ ಪ್ರಾಣಲಿಂಗಕ್ಕೆ ಪ್ರಾಣಪೂಜೆಯ ಮಾಡಿದ. ॥೩೬೬॥

೧೦೬೧

ಕರ್ಮದ ಕಟ್ಟನೆ ಕೊಯ್ದು ಬ್ರಹ್ಮದ್ವಾರವ ಕಂಡೆ,
ಮೇಲೊಂದು ಕಂಬವ ಕಂಡೆನಲ್ಲಾ !
ಕಂಬವ ಖಂಡಣೆಯ ಮಾಡಿ ಮಹಾಬೆಳಗನೆ ಕಂಡೆ
ಗುಹೇಶ್ವರನೆಂಬ ಲಿಂಗ ಅಲ್ಲಿಯೆ ನಿಂದನು. ॥೩೬೭॥

೧೦೬೨

ಕರ್ಮದ ಗಡಣ ಹಿಂಗಿದುವಿಂದು,
ಪಾಪದ ಬಲೆ ಬಳಸಿ ಹೋದವು.
ಬಲ್ಲೆನು ಈ ಸಂಸಾರದಲ್ಲಿ ನೊಂದು ಬೆಂದೆನಾಗಿ,

ಮಾಯೆಯ ತಲೆಯ ಮೆಟ್ಟಿ ಹೋದೆನು.
ಇನ್ನು ಮರಳಿ ಬಾರೆನು ಗುಹೇಶ್ವರಾ ನಿಮ್ಮಾಣೆ. ॥೩೬೮॥

೧೦೬೩

ಕರ್ಮವಿಲ್ಲದ ಕಾಯ, ಕರಣವಿಲ್ಲದ ಪ್ರಾಣ.
ಮಥನವಿಲ್ಲದ ಶಬ್ದ, ಗಮನವಿಲ್ಲದ ಮನ.
ಗುಹೇಶ್ವರಾ ನಿಮ್ಮ ಬರವು ಸಂಗನಬಸವಣ್ಣನ ಮೆಚ್ಚು ನೋಡಾ. ॥೩೬೯॥

೧೦೬೪

ಕರ್ಮವೆ ಪ್ರಾಣವೆಂದು ಮಾಡುವಾಗ
ಜ್ಞಾನವವನರಿವ ನೆಲೆ ಶುದ್ಧವಿನ್ನಾವುದು ?
ಸಾವನ್ನಕ್ಕ ಸಾಧನೆಯ ಮಾಡಿ ಕಾದುವ ಠಾವಿನ್ನಾವುದು ?
ಅರಿದುದ ನೇತಿಗಳೆದು; ಮೇಲರಿದುದ ಕರಿಗೊಳುತ್ತ
ತುಷವ ನೀಗಿದ ತಂಡುಲದಂತೆ
ಕಾಯದ ದೆಸೆ ಶುದ್ಧವಾಗಿರಬೇಕು, ಸಿದ್ಧರಾಮಯ್ಯಾ
ಗುಹೇಶ್ವರಲಿಂಗವನರಿವುದಕ್ಕೆ. ॥೩೭೦॥

೧೦೬೫

ಕಲಿ ತನ್ನ ತಲೆಯನರಿದು ಕೈಯಲ್ಲಿ ಹಿಡಿದು
ಹಲವು ದ್ವೀಪಕ್ಕೆ ಹೋಗಿ ತೊಳಲುತ್ತೈದಾನೆ !
ಕಂಡವರು ತೋರಿರೆ, ಕೇಳಿದವರು ಹೇಳಿರೆ,
ಬುದ್ಧಿಗೆಟ್ಟವ ಸುದ್ದಿಯ ಬೆಸಗೊಳ್ಳುತ್ತೈದಾನೆ !
ತಲೆ ತಲೆಯನೆ ನುಂಗಿ ಹಲವು ದ್ವೀಪಕ್ಕೆ ಹೋಯಿತ್ತು.
ಗುಹೇಶ್ವರಾ–ತಲೆ ಮೊದಲಿಲ್ಲ ! ॥೩೭೧॥

೧೦೬೬

ಕಲ್ಪಿತವೆಂಬ ಭಕ್ತ ಮಾಡಿದ ಸಯಧಾನವ ನೋಡಾ !
ಅನಂತಕೋಟಿ ಅಜಾಂಡಗಳೆ ಸಯಧಾನವಾಗಿ
ಸವಿಕಲ್ಪ ವಿಷಯಂಗಳೆ ಶಾಕವಾಗಿ
ಸರ್ವವಾಸನೆ ಎಂಬುದೆ ಅಭಿಘಾರವಾಗಿ–
ಇವೆಲ್ಲವನೂ ಜ್ಞಾನವೆಂಬ ಭಾಜನದಲ್ಲಿ ಎಡೆಮಾಡುತ್ತಿರಲು

ಉಣ ಬಂದ ಹಿರಿಯರು ಉಣುತ್ತಿದ್ದುದ ನೋಡಿರೆ !
ನಿರ್ವಿಕಲ್ಪಿತವೆಂಬ ಮಹಂತ ಬರಲು,
ಸಯಧಾನವಡಗಿತ್ತು, ಭಾಜನ ಉಳಿಯಿತ್ತು.
ಆ ಭಾಜನವನುತ್ತಮಾಂಗದಲ್ಲಿ ಅಳವಡಿಸಿಕೊಳಲು
ನಿಶ್ಚಿಂತವಾಯಿತ್ತು ಗುಹೇಶ್ವರಾ. ॥೩೭೨॥

೧೦೬೭

ಕಲ್ಯಾಣವೆಂಬ ಪ್ರಣತೆಯಲ್ಲಿ ಭಕ್ತಿರಸವೆಂಬ ತೈಲವನೆರೆದು,
ಆಚಾರವೆಂಬ ಬತ್ತಿಯಲ್ಲಿ ಬಸವಣ್ಣನೆಂಬ ಜ್ಯೋತಿಯ ಮುಟ್ಟಿಸಲು
ತೊಳಗಿ ಬೆಳಗುತ್ತಿದ್ದಿತ್ತಯ್ಯಾ ಶಿವನ ಪ್ರಕಾಶ !
ಆ ಬೆಳಗಿನೊಳಗೆ ಒಪ್ಪುತ್ತಿದ್ದರಯ್ಯಾ ಅಸಂಖ್ಯಾತ ಭಕ್ತಗಣಂಗಳು.
ಶಿವಭಕ್ತರಿರ್ದ ಕ್ಷೇತ್ರವೆ ಅವಿಮುಕ್ತಕ್ಷೇತ್ರವೆಂಬುದು ಹುಸಿಯೆ ?
ಶಿವಭಕ್ತರಿರ್ದ ದೇಶ ಪಾವನವೆಂಬುದು ಹುಸಿಯೆ ?
ಗುಹೇಶ್ವರಲಿಂಗದಲ್ಲಿ ಎನ್ನ ಪರಮಾರಾಧ್ಯ ಸಂಗನಬಸವಣ್ಣನ ಕಂಡು
ಬದುಕಿದೆನು ಕಾಣಾ ಸಿದ್ಧರಾಮಯ್ಯಾ. ॥೩೭೩॥

೧೦೬೮

ಕವಿತ್ವಸಾಧಕರೆಲ್ಲರು ಕಳವಳಿಸಿ ಕೆಟ್ಟರು.
ವಿದ್ಯಾಸಾಧಕರೆಲ್ಲರು ಬುದ್ಧಿಹೀನರಾದರು.
ಪವನ ಸಾಧಕರೆಲ್ಲರು ಹದ್ದು ಕಾಗೆಗಳಾದರು.
ಜಲಸಾಧಕರೆಲ್ಲರು ಕಪ್ಪೆ ಮೀನಗಳಾದರು.
ಅನ್ನಸಾಧಕರೆಲ್ಲರು ಭೂತಪ್ರಾಣಿಗಳಾದರು.
ಬಸವಣ್ಣ, ಸದ್ಗುರುಸಾಧಕನಾಗಿ
ಸ್ವಯಲಿಂಗವಾದ ಕಾಣಾ ಗುಹೇಶ್ವರಾ. ॥೩೭೪॥

೧೦೬೯

ಕಾಗೆಯ ತಿಂದವನಲ್ಲದೆ ಭಕ್ತನಲ್ಲ.
ಕೋಣನ ತಿಂದವನಲ್ಲದೆ ಮಹೇಶ್ವರನಲ್ಲ.
ಕೋಡಗನ ತಿಂದವನಲ್ಲದೆ ಪ್ರಸಾದಿಯಲ್ಲ.
ನಾಯ ತಿಂದವನಲ್ಲದೆ ಪ್ರಾಣಲಿಂಗಿಯಲ್ಲ.
ಹೇಯವ ತಿಂದವನಲ್ಲದೆ ಶರಣನಲ್ಲ.
ಇಂತೈವರ ತಿಂದವನಲ್ಲದೆ ಲಿಂಗೈಕ್ಯನಲ್ಲ ಗುಹೇಶ್ವರ ! ॥೩೭೫॥

೧೦೭೦

ಕಾಡಿ ಬೇಡಿ ಉಂಬವರೆಲ್ಲರು ಬ್ರಹ್ಮನ ಸಂಪ್ರದಾಯ.
ಕುಟ್ಟಿ ಕುಟ್ಟಿ ಉಂಬವರೆಲ್ಲರು ವಿಷ್ಣುವಿನ ಸಂಪ್ರದಾಯ.
ದಳಾದಳಿಯಲುಂಬವರೆಲ್ಲರು ಯಮನ ಸಂಪ್ರದಾಯ.
ಇವಾವವನೂ ಹೊದ್ದದೆ ಭಕ್ತಿಭಿಕ್ಷವನುಂಬವರೆಲ್ಲ
ನಿಮ್ಮ ಸಂಪ್ರದಾಯ ಕಾಣಾ ಗುಹೇಶ್ವರಾ. ॥೩೭೬॥

೧೦೭೧

ಕಾಡುಗಿಚ್ಚೆದ್ದಡೆ ಅಡವಿಯೆ ಗುರಿ.
ನೀರುಗಿಚ್ಚೆದ್ದಡೆ ಸಮುದ್ರವೆ ಗುರಿ.
ಒಡಲುಗಿಚ್ಚೆದ್ದಡೆ ತನುವೆ ಗುರಿ.
ಕಾಲಾಗ್ನಿಯೆದ್ದಡೆ ಲೋಕಂಗಳೆ ಗುರಿ.
ಶಿವಶರಣರ ಮನದಲ್ಲಿ ಕೋಪಾಗ್ನಿಯೆದ್ದಡೆ ನಿಂದಕರೆ ಗುರಿ.
ಗುಹೇಶ್ವರಾ ನಿಮ್ಮ ಮಾಯದ ಹೊಡೆಗಿಚ್ಚಿಂಗೆ
ನಾನು ಗುರಿಯಲ್ಲ ಕೇಳಾ. ॥೩೭೭॥

೧೦೭೨

ಕಾಣದುದ ಕಂಡೆ, ಕೇಳದುದ ಕೇಳಿದೆ–
ಮುಟ್ಟಬಾರದುದ ಮುಟ್ಟಿದ, ಅಸಾಧ್ಯವ ಸಾಧಿಸಿದ,
ತಲೆಗೆಟ್ಟುದ ತಲೆವಿಡಿದ, ನೆಲೆಗೆಟ್ಟುದ ನಿರ್ಧರಿಸಿದ.
ಗುಹೇಶ್ವರಾ ನಿಮ್ಮ ಶರಣ ಅಜಗಣ್ಣಂಗೆ
ಶರಣೆಂದು ಶುದ್ಧನಾದೆನು. ॥೩೭೮॥

೧೦೭೩

ಕಾಣಬಹ ತನು, ಕೇಳಬಹ ಧ್ವನಿಯಿಂದ
ಆಳವಾಡಿ ಕಾಡುತ್ತದೆ ಲೋಕವನು,
ಅಯ್ಯಾ ಅಯ್ಯಾ ಬೊಮ್ಮವೆ !
ಅಣಕಿಸಿ ಲೋಕವನು ಕಾಡುತ್ತದೆ,
ಅಯ್ಯಾ ಅಯ್ಯಾ ಬೊಮ್ಮವೆ !
ಬೊಮ್ಮ ತಾನೆಂದರಿದು ಸಂಸಾರದ ಬೇರ ಹರಿಯಬಲ್ಲ[ವ]
ಶರಣನೊಬ್ಬನೆ ಗುಹೇಶ್ವರಾ. ॥೩೭೯॥

೧೦೭೪

ಕಾಣಬಾರದ ಗುರು ಕಣ್ಗೆ ಗೋಚರವಾದಡೆ;–
ಹೇಳಲಿಲ್ಲದ ಬಿನ್ನಪ್ಪ, ಮುಟ್ಟಲಿಲ್ಲದ ಹಸ್ತಮಸ್ತಕಸಂಯೋಗ.
ಹೂಸಲಿಲ್ಲದ ವಿಭೂತಿಯ ಪಟ್ಟ, ಕೇಳಲಿಲ್ಲದ ಕರ್ಣಮಂತ್ರ.
ತುಂಬಿ ತುಳುಕದ ಕಲಶಾಭಿಷೇಕ ಆಗಮವಿಲ್ಲದ ದೀಕ್ಷೆ,
ಪೂಜೆಗೆ ಬಾರದ ಲಿಂಗ, ಸಂಗವಿಲ್ಲದ ಸಂಬಂಧ.
ಸ್ವಯವಪ್ಪ ಅನುಗ್ರಹ,
ಅನುಗೊಂಬಂತೆ ಮಾಡಾ ಗುಹೇಶ್ವರಾ. ॥೩೮೦॥

೧೦೭೫

ಕಾಮದಿಂದ ಕಂಡ, ಕ್ರೋಧದಿಂದ ಅಸ್ಥಿ,
ಲೋಭದಿಂದ ಸಕಲ ವಿಷಯಂಗಳು.
ಮೋಹದಿಂದ ನೋಡಿಹೆನೆಂಬುದೆಲ್ಲವು ಕಾಮನ ಬಲೆಯೊಳಗು.
ಕಾಮನ ಗೆದ್ದ ಠಾವಾವುದು ಹೇಳಾ ಗುಹೇಶ್ವರಲಿಂಗಕ್ಕೆ ? ॥೩೮೧॥

೧೦೭೬

ಕಾಮನ ಕಣ್ಣ ಮುಳ್ಳ ಕಳೆದು
ಭೂಮಿಯ ತೈಲದ ಸೀಮೆಯ ಕೆಡಿಸಿ
ಹೋಮವನುರುಹಿ ದಕ್ಷನ ತಲೆಯನರಿದು
ನಿಸ್ಸೀಮನಾದ ಮಹಿಮನ ನಿಲವನರಿಯಬಹುದೆ ?
ಅರಿವಿಂಗೆ ಅಸಾಧ್ಯ ಉಪಮೆಗೆ ಕಡೆಮುಟ್ಟದು !
ಗುಹೇಶ್ವರನ ಕರುಣಪ್ರಸಾದಿ ಮರುಳಶಂಕರದೇವರೆಂತಪ್ಪನೆಂಬುದ
ತಿಳಿದು ನೋಡಾ ಸಂಗನಬಸವಣ್ಣ. ॥೩೮೨॥

೧೦೭೭

ಕಾಮನ ಕೊಲುವಲ್ಲಿ ಹೋಮವ ಸುಡುವಲ್ಲಿ
ತ್ರಿಪುರಸಂಹಾರದ ಕೀಲನರಿವಲ್ಲಿ
ಆತನ 'ಯೋಗಿ' ಎನಬೇಡ ಆತನ 'ಭೋಗಿ' ಎನಬೇಡ.
ಆತನೆ ಅಚ್ಚಲಿಂಗೈಕ್ಯನು !
ಹಸಿವ ಮರೆದಲ್ಲಿ ವ್ಯಸನವರತಲ್ಲಿ
ಗುಹೇಶ್ವರಲಿಂಗವು, ಸಿದ್ಧರಾಮಯ್ಯದೇವರು ತಾನೆ ! ॥೩೮೩॥

೧೦೭೮

ಕಾಮವಿಲ್ಲ, ಕ್ರೋಧವಿಲ್ಲ, ಲೋಭವಿಲ್ಲ,
ಮೋಹವಿಲ್ಲ, ಮದವಿಲ್ಲ, ಮತ್ಸರವಿಲ್ಲ, ಹಸಿವು, ತೃಷೆ,
ವಿಷಯ, ವ್ಯಸನವ್ಯಾಪ್ತಿಗಳಿಲ್ಲ, ಸಂಸಾರ ಬಂಧನ ಮುನ್ನಿಲ್ಲ,
ಪುಣ್ಯವಿಲ್ಲ, ಪಾಪವಿಲ್ಲ, ಆಚಾರ ಅನಾಚಾರವೆಂಬುದಿಲ್ಲ,
ಸದಾಚಾರ ಸಂಪೂರ್ಣ, ಗುಹೇಶ್ವರಾ, ನಿಮ್ಮ ಶರಣ. ||೩೮೪||

೧೦೭೯

ಕಾಮ ಸತ್ಯವ ತಿಂದಿತ್ತು, ಕ್ರೋಧ ಜ್ಞಾನವ ತಿಂದಿತ್ತು,
ಲೋಭ ಧರ್ಮವ ತಿಂದಿತ್ತು,
ಮೋಹ ವಿರಕ್ತಿಯ ತಿಂದಿತ್ತು, ಮದ ಭಕ್ತಿಯ ತಿಂದಿತ್ತು,
ಮತ್ಸರ ಯು(ಮು ?)ಕ್ತಿಯ ತಿಂದಿತ್ತು.
ಈ ಕಾಮ ಕ್ರೋಧ ಲೋಭ ಮೋಹ ಮದ ಮಾತ್ಸರ್ಯವೆಂಬ
ಅರಿಷಡ್ವರ್ಗಂಗಳಿವು ನಿಮ್ಮ ನೈದಲರಿಯದೆ,
ಈ ಸತ್ಯ ಜ್ಞಾನ ಧರ್ಮ ವಿರಕ್ತಿ ಭಕ್ತಿ ಯುಕ್ತಿಗಳೆಂಬ ಸದ್ವರ್ತನೆಯ,
ದುರ್ವರ್ತನೆಯೆಂಬರಿಷಡುವರ್ಗಂಗಳೆಂಬ ನಾಡ ನಾಯಿಗಳೆ ತಿಂದವು.
ಎನಗೆ ಸದ್ವರ್ತನೆಯಿಲ್ಲದೆ ಅಪ್ರದೇಶಿಕನಾದೆನು ಕಾಣಾ ಗುಹೇಶ್ವರಾ. ||೩೮೫||

೧೦೮೦

ಕಾಮಿಸಿ ದೃಷ್ಟಿ ನಟ್ಟು ನಿಬ್ಬೆರಗಾದವರ ಕಂಡೆನಯ್ಯಾ.
ಕಲ್ಪಿಸಿ ದೃಷ್ಟಿ ನಟ್ಟು ನಿಬ್ಬೆರಗಾದವರ ಕಂಡೆನಯ್ಯಾ
ಭಾವಿಸಿ ದೃಷ್ಟಿ ನಟ್ಟು ನಿಬ್ಬೆರಗಾದವರ ಕಂಡೆನಯ್ಯಾ
ರೂಪಿಸಿ ದೃಷ್ಟಿ ನಟ್ಟು ನಿಬ್ಬೆರಗಾದವರ ಕಂಡೆನಯ್ಯಾ
ಪೂರ್ವಾಚಾರ್ಯ ಸಂಗನಬಸವಣ್ಣನ ಕಂಡು
ಗುಹೇಶ್ವರಲಿಂಗವು ಅಲ್ಲಿಯೆ ಅನುಶ್ರುತವಯ್ಯಾ ! ||೩೮೬||

೧೦೮೧

ಕಾಯ ಉಭಯಭೇದವಾಗಿ, ಆತ್ಮನೇಕವಾಗಿ;
ಕಾಯ ಭಕ್ತನಾಗಿ, ಪ್ರಾಣ ಜಂಗಮವಾಗಿ;
ನಾ ಹಿಡಿದ ರೂಪು ಬಸವಣ್ಣನಾಗಿ;
ಅರಿದರಿದು ಗುಹೇಶ್ವರಲಿಂಗವಾಗಿ ನೆನೆವುತ್ತಿದ್ದೆನು. ||೩೮೭||

೧೦೮೨

ಕಾಯಕ್ಕೆ ಕಾಯವಾಗಿ, ತನುವಿಂಗೆ ತನುವಾಗಿ
ಮನಕ್ಕೆ ಮನವಾಗಿ ಜೀವಕ್ಕೆ ಜೀವವಾಗಿ ಇದ್ದುದನಾರುಬಲ್ಲರೊ ?
ಅದು ದೂರವೆಂದು, ಅದು ಸಮೀಪವೆಂದು
ಮಹಂತ ಗುಹೇಶ್ವರನೊಳಗೆಂದು, ಹೊರಗೆಂದು
ಬರುಸೂರೆಹೋದರೆಲ್ಲರೂ. ॥೩೮೮॥

೧೦೮೩

ಕಾಯಕ್ಕೆ ಜೀವಕ್ಕೆ ಸಂದು ಮುನ್ನುಳ್ಳಡೆ,
ಅದು ಪ್ರಾಣಲಿಂಗವಲ್ಲ ಕಾಣಿರೆ.
ಲೋಕಾಚಾರದ ಕೂಳನುಂಡು, ಲೀಲೆಯೊಳಾಡುತಿಹರಲ್ಲದೆ
ಸಲೆ ಸಂದವರಪ್ಪರೆ ?
ಈ ಕಲ್ಲ ಹಿಡಿದಾತ ಆ ಕಲ್ಲನೆತ್ತ ಬಲ್ಲ ?
ಇವರೊಬ್ಬರ ಕರೆದಡೆ ಒಬ್ಬರು (ಇಬ್ಬರು ?) 'ಓ' ಎಂಬಂತೆ.
ಇವರಿಬ್ಬರ ಭಾವ ಹುರುಳಿಲ್ಲ ಕಾಣಾ ಗುಹೇಶ್ವರಾ. ॥೩೮೯॥

೧೦೮೪

ಕಾಯಗುಣ ಕೆಟ್ಟ ಮತ್ತೆ ಅರ್ಚನೆ ಹಿಂಗಿತ್ತು.
ಪ್ರಾಣಗುಣ ಕೆಟ್ಟ ಮತ್ತೆ ಅರ್ಪಿತ ಹಿಂಗಿತ್ತು.
ಭಾವಗುಣ ಕೆಟ್ಟ ಮತ್ತೆ ಉಭಯ ಜಂಜಡ ಹಿಂಗಿತ್ತು.
ಇಂತಾದ ಕಾರಣ–ನಮ್ಮ ಗುಹೇಶ್ವರನ ಶರಣರು
ಲಿಂಗಭೋಗೋಪಭೋಗವೆಂಬ ಖಂಡಿತ ಬುದ್ಧಿಯ ಮೀರಿ,
ಅಖಂಡಾದ್ವೈತಬ್ರಹ್ಮದಲ್ಲಿ ತಲ್ಲೀಯವಾದರು. ॥೩೯೦॥

೧೦೮೫

ಕಾಯಗುಣವಳಿದು ಜೀವನ್ಮುಕ್ತನಾದ ಬಳಿಕ
ಸಮ್ಯಕ್‌ಜ್ಞಾನವೆಂಬ ಶಾಂತಿ ದೊರೆಕೊಂಡಿತ್ತು ನೋಡಿರೆ !
ಅಂತರಂಗ ಬಹಿರಂಗವೆಂಬುದನು ಅರಿಯನಾಗಿ
ದ್ವೈತಾದ್ವೈತವ ನೀಕರಿಸಿ, ನಿರ್ವಾಣ ನಿಷ್ಪತ್ತಿಯಾಗಿ,
ಗುಹೇಶ್ವರಾ ನಿಮ್ಮ ಶರಣನನುಪಮ ಸುಖಿಯಾಗಿರ್ದನು. ॥೩೯೧॥

೧೦೮೭

ಕಾಯಗುಣವಳಿದು ಮಾಯಾಮದ ಮುರಿದು,
ಕಾಮಕ್ರೋಧಂಗಳೆಲ್ಲವು ಹೆರೆಹಿಂಗಿ ಹೋದವು.
ಅಂಗವೆಲ್ಲವು ಲಿಂಗಲೀಯವಾಗಿ ಕಂಗಳ ಕಳೆಯ ಬೆಳಗಳಿದು
ಗುಹೇಶ್ವರನ ವಿರಹದುರಿಯೊಳಗೆ ಬೆಂದವರ
ಮರಳಿ ಸುಟ್ಟಿಹೆನೆಂಬ ಸಿದ್ಧರಾಮಯ್ಯ ಮರುಳ ನೋಡಾ. ॥೩೯೨॥

೧೦೮೮

ಕಾಯಗೊಂಡ ಮಾನವರಂತೆ ಕೈಗೆ ಸಿಲುಕ.
ಪ್ರಾಣವಿಡಿದ ಜೀವಿಗಳಂತೆ ಎಡೆಯಾಡದಿಪ್ಪ.
ಕಾಂಬಡೆ ಕಂಗಳತೆಯಲ್ಲ, ಕೇಳುವಡೆ ಕಿವಿಗಳತೆಯಲ್ಲ.
ಗುಹೇಶ್ವರನ ನಿಲುವು ಬರಿಯ ಸ್ತೋತ್ರಕ್ಕೆ ನಿಲುಕದು.
ಕಾಣಾ ಸಿದ್ಧರಾಮಯ್ಯಾ. ॥೩೯೩॥

೧೦೮೯

ಕಾಯಗೊಂಡು ಹುಟ್ಟಿದವರು;
ದೇವರಾದಡಾಗಲಿ ಈವರಾದಡಾಗಲಿ
ಮಾಯೆಯ ಸಾಧಿಸಿ ಗೆಲುವದರಿದು ನೋಡಾ !
ಮನದ ತಮಂಧವ ಗೆಲಿದು,
ನೆನೆದು ಸುಖಿಯಾದೆಹೆನೆಂಬವರ ಬೆಂಬತ್ತಿ ಕಾಡಿತ್ತು ಕರ್ಮ.
ಗುಹೇಶ್ವರಲಿಂಗವ ಕಿರಕಿರಿದಾಗಿ ನೆನೆದಡೆ
ಹಿರಿಹಿರಿದಾಗಿ ಕಾಡುವುದು ನೋಡಾ ಮರಹು !
ಸಂಗನಬಸವಣ್ಣಾ ನೀ ನೆನೆದ ನೆನಹು ಆರಂತಹುದೂ ಅಲ್ಲ ನೋಡಾ. ॥೩೯೪॥

೧೦೯೦

ಕಾಯದ ಒಲವರದಲ್ಲಿ ನಿಲುವ ಚಿತ್ತ,
ಕಂಗಳ ಗೊತ್ತಿನಲ್ಲಿ ಕಟ್ಟುವಡೆದು
ದೃಷ್ಟದ ಇಷ್ಟದಲ್ಲಿ ಕಂಗಳ ಸೂತಕ ಹಿಂಗಿ
ಮನದ ಸೂತಕ ಹರಿದು
ಗುಹೇಶ್ವರನೆಂಬ ಭಾವದ ಭ್ರಮೆ ಅಡಗಬೇಕು. ॥೩೯೫॥

೧೧೯೦

ಕಾಯದ ಕಳವಳಕ್ಕಂಜಿ ಪ್ರಾಣ ಹೋದಲ್ಲಿ,
ಭವ ಹಿಂಗದು, ಪ್ರಕೃತಿ ಬಿಡದು.
ವಾಯಕ್ಕಾದಡೆ ಸತ್ತು ದೇವರ ಕೂಡಿಹೆವೆಂಬರು,
ಈ ವಾಯದ ಮಾತಿಂಗೆ ಆನು ಬೆರಗಾದೆನು.
ಕಾಯವಿದ್ದಲ್ಲಿ ಸಾಯದ ಸಾವ ಬಲ್ಲಡೆ
ಬೇರಿಲ್ಲ, ಗುಹೇಶ್ವರ ತಾನೆ ! ॥೩೯೬॥

೧೧೯೧

ಕಾಯದ ಕಳವಳ ಕಾಣೆನೆಂದಲ್ಲಿ ಹೋಯಿತ್ತು.
ಜೀವದ ದುಷ್ಕೃತ ದೂರವೆಂದಲ್ಲಿ ತಪ್ಪಿತ್ತು.
ಕಾಯ ಜೀವವೆಂಬ ಸೂತಕ, ಮನ ನಿರ್ಮಲವಾದಲ್ಲಿಯೆ ಅಳಿಯಿತ್ತು.
ಗುಹೇಶ್ವರನೆಂಬ ಲಿಂಗವನರಿಯ ಬೇಕಾದಡೆ,
ನಿನ್ನ ಒಳಗ ತೊಳೆದು ನೋಡಾ ಸಿದ್ಧರಾಮಯ್ಯಾ. ॥೩೯೭॥

೧೧೯೨

ಕಾಯದ ಕೈಯಲ್ಲಿ ಲಿಂಗಕ್ಕೆ ಮಜ್ಜನ,
ಪ್ರಾಣದ ಕೈಯಲ್ಲಿ ಜಂಗಮಕ್ಕೆ ಭೋಜನ
ಇವ ಮಾಡಲಿ ಬೇಕು.
ಸುಳಿವ ಸುಳುಹುಳ್ಳನ್ನಕ್ಕ ಲಿಂಗಜಂಗಮಕ್ಕೆ ಮಾಡಲೆ ಬೇಕು.
ಗುಹೇಶ್ವರನೆಂಬ ಆತ್ಮನುಳ್ಳನ್ನಕ್ಕ ಸತ್ಕ್ರೀಯ ಮಾಡಲಿ ಬೇಕು. ॥೩೯೮॥

೧೧೯೩

ಕಾಯದ ಮೇಲೆ ಕಲ್ಲು ಬೀಳಲಿಕ್ಕೆ
ಜೀವ ಆ ಠಾವನರಿದು
ಕಾವು ಮಾಡಿಸಿಕೊಂಬಾಗ
ನೋವನರಿವುದು ಕಾಯವೊ ? ಜೀವವೊ ? ಉಭಯ ಸಮವೊ ?
ಗುಹೇಶ್ವರಲಿಂಗಕ್ಕೆ ಅನ್ಯವಿಲ್ಲ ಸಂಗನಬಸವಣ್ಣಾ. ॥೩೯೯॥

೧೧೯೪

ಕಾಯದಲಾದ ಅರ್ಪಿತ ಅರ್ಪಿತವಲ್ಲ.
ಪ್ರಾಣದಲಾದ ಅರ್ಪಿತ ಅರ್ಪಿತವಲ್ಲ.

ಭಾವದಲಾದ ಅರ್ಪಿತ ಅರ್ಪಿತವಲ್ಲ.
ಅರಿವಿನಲಾದ ಅರ್ಪಿತ ಅರ್ಪಿತವಲ್ಲ.
ನೆನಹಿಲ್ಲದ ಅವಧಾನ ಮರಹಿಲ್ಲದ ಆರೋಗಣೆ
ತಟ್ಟದ ಮುಟ್ಟದ ಅರ್ಪಿತ !
ಗುಹೇಶ್ವರಲಿಂಗದ ಆರೋಗಣೆಯನು,
ಇಂದು ಬಸವಣ್ಣನಿಂದ ಕಂಡೆನು. ॥೪೦೦॥

೧೧೯೫

ಕಾಯದಲಾದ ಮೂರ್ತಿಯಲ್ಲ, ಜೀವದಲಾದ ಮೂರ್ತಿಯಲ್ಲ,
ಪ್ರಾಣದಲಾದ ಮೂರ್ತಿಯಲ್ಲ, ಪುಣ್ಯದಲಾದ ಮೂರ್ತಿಯಲ್ಲ,
ಮುಕ್ತಿಯಲಾದ ಮೂರ್ತಿಯಲ್ಲ,
ಯುಗದಲಾದ ಮೂರ್ತಿಯಲ್ಲ, ಜುಗದಲಾದ ಮೂರ್ತಿಯಲ್ಲ,
ಇದೆಂತಹ ಮೂರ್ತಿಯೆಂದುಪಮಿಸುವೆ ?
ಕಾಣಬಾರದ ಕಾಯ ನೋಡಬಾರದ ತೇಜ,
ಉಪಮಿಸಬಾರದ ನಿಲವು.
ಕಾರಣವಿಡಿದು ಕಣ್ಗೆ ಗೋಚರವಾದ ಸುಖವನು
ಏನೆಂದು ಹೇಳುವೆ ಗುಹೇಶ್ವರಾ ? ॥೪೦೧॥

೧೧೯೬

ಕಾಯದಲ್ಲಿ ಕಾಯ ಸವೆದು,
ಪ್ರಾಣದಲ್ಲಿ ಪ್ರಾಣ ಸವೆದು–ನಿಶ್ಚಿಂತವಾದ ಬಳಿಕ
ಹಸಿವು–ತೃಷೆಗಳೆಂಬವು ಅಳಿದು ಹೋದವು ನೋಡಾ.
ಉಂಡಿಹೆನೆಂಬ ಬಯಕೆಯಿಲ್ಲ ಒಲ್ಲೆನೆಂಬ ವೈರಾಗ್ಯವಿಲ್ಲ.
ಇದು ಸ್ವಾನುಭಾವತೃಪ್ತಿಯೊಳಡಗಿತ್ತು.
ಇದು ಕಾರಣ–ನಮ್ಮ ಗುಹೇಶ್ವರಲಿಂಗಕ್ಕೆ
ಆರೋಗಣೆ ಇಲ್ಲ ಕಾಣಾ ಸಂಗನಬಸವಣ್ಣಾ. ॥೪೦೨॥

೧೧೯೭

ಕಾಯದೊಳಗೆ ಕರಣವಿಲ್ಲ, ಪ್ರಾಣದೊಳಗೆ ಭಾವವಿಲ್ಲ.
ಭಾವದೊಳಗೆ ಭ್ರಮೆಯಿಲ್ಲ, ನವನಾಳದೊಳಗೆ ಸುಳುಹು ಮುನ್ನಿಲ್ಲ.
ಬ್ರಹ್ಮರಂಧ್ರದಲ್ಲಿ ಅರಿವು ಅರತ ಶಿವಯೋಗಿ:

ಗುಹೇಶ್ವರನ ಶರಣ ಸಿದ್ಧರಾಮಯ್ಯಾ
ನಿನ್ನ ಕಂಡು ಎನ್ನ ಭವಂ ನಾಸ್ತಿಯಾಯಿತ್ತು ಕೇಳಾ. ॥೪೦೩॥

೧೯೮

ಕಾಯದೊಳಗೆ ಕಾಯವಾಗಿ, ಪ್ರಾಣದೊಳಗೆ ಪ್ರಾಣವಾಗಿ,
ಮನದೊಳಗೆ ಮನವಾಗಿ ಭಾವದೊಳಗೆ ಭಾವವಾಗಿ
ಅರಿವಿನೊಳಗೆ ಅರಿವಿನ ತಿರುಳಾಗಿ, – ಮರಹು ಮಾರಡೆಯಿಲ್ಲದೆ.
ನಿಜಪದವು ಸಾಧ್ಯವಾದ ಬಳಿಕ
ಆವುದು ವರ್ಮ, ಆವುದು ಕರ್ಮ ?
ಆವುದು ಬೋಧೆ, ಆವುದು ಸಂಬಂಧ ?
ನಾ ಹೇಳಲಿಲ್ಲ ನೀ ಕೇಳಲಿಲ್ಲ !
ಅದೇನು ಕಾರಣವೆಂದಡೆ ಬೆಸಗೊಂಬಡೆ ತೆರಹಿಲ್ಲವಾಗಿ !
ಗುಹೇಶ್ವರಲಿಂಗದಲ್ಲಿ ತೆರೆಮರೆ ಆವುದು ಹೇಳಯ್ಯಾ ಬಸವಣ್ಣಾ ? ॥೪೦೪॥

೧೯೯

ಕಾಯ ಲಿಂಗೈಕ್ಯವೆ ? ಅಲ್ಲ ನಿಲ್ಲು.
ಜೀವ ಲಿಂಗೈಕ್ಯವೆ ? ಅಲ್ಲ ನಿಲ್ಲು.
ಕಾಯದ ಜೀವದ ಸಂದ ಬಲ್ಲಡೆ – ಆತ ಲಿಂಗೈಕ್ಯ.
ಒಂಬತ್ತು ದ್ವಾರಮಂ ಕಳೆದು, ಹತ್ತನೆಯ ದ್ವಾರದಲ್ಲಿ ನಿಲಬಲ್ಲಡೆ
ಆತನೆ ಗುರು ಕಾಣಾ ಗುಹೇಶ್ವರಾ. ॥೪೦೫॥

೧೧೦೦

ಕಾಯುವ ಹೊತ್ತು ತಿರುಗಾಡುವನ್ನಬರ
ನಾನರಿದೆನೆಂಬುದು ಹುಸಿಯಾಯಿತ್ತು.
ಅರಿದಡೆ ತಾವರೆ ಎಲೆಯ ಬಿಂದುವಿನಂತೆ ಲೇಪವಿಲ್ಲದೆ
ಗುಹೇಶ್ವರಲಿಂಗವನರಿಯಬೇಕು ಸಂಗನಬಸವಣ್ಣಾ. ॥೪೦೬॥

೧೧೦೧

ಕಾಯವಿಡಿದು ಲಿಂಗವಿದೆ ಲಿಂಗವಿಡಿದು ಕಾಯವಿದೆ.
ಅರಿವಿಡಿದು ಮರಹಿದೆ, ಮರಹುವಿಡಿದು
ತೋರುವ ಅರಿವಿದೆ.

ಲಿಂಗಾಂಗವೆರಡೂ ನಿಮ್ಮಲ್ಲಿ ಐಕ್ಯವಾದ ಪರಿ ಎಂತು ಹೇಳಾ ?
ಸ್ವರವಿಡಿದು ಸಬುದ ಸಮರಸವಾದ ಪರಿ ಎಂತು ಹೇಳಾ ?
'ದೇವ' 'ಭಕ್ತ' ಎಂಬ ನಾಮ ಸೀಮೆಯಡಗಿ
ಗುಹೇಶ್ವರಲಿಂಗದಲ್ಲಿ ತದುಗತವಾಗಿದ್ದ ಪರಿ ಎಂತು ಹೇಳಾ
ಸಂಗನಬಸವಣ್ಣಾ ? ॥೪೦೭॥

೧೧೦೨

ಕಾಯವಿಡಿದು ಸುಳಿದಾಡುವನ್ನಕ್ಕ,
ಕರಣಂಗಳ ಮೀರುವರಾರೈ ಚೆನ್ನಬಸವಣ್ಣಾ ?
ಕರಣಂಗಳಿಂದ ಕರ್ಮಂಗಳ ಮಾಡುತ್ತಿದ್ದಿತು.
ಕರ್ಮವ ಕರ್ಮದಿಂದ ಅಳಿದು ಮಲವ ಜಲ ತೊಳೆದಂತೆ,–
ನಾನು ಕಾಯದ ಕರ್ಮ ಮಾಡುವಲ್ಲಿ,
ಜೀವವಿಕಾರ ಬಿಡಿಸಿದೆಯಲ್ಲಾ !
ಗುಹೇಶ್ವರಲಿಂಗಕ್ಕೆ ಒಡಲಿಲ್ಲ ಎಂಬುದನು,
ಅರುಹಿದೆಯಲ್ಲಾ ಚೆನ್ನಬಸವಣ್ಣಾ. ॥೪೦೮॥

೧೧೦೩

ಕಾಯವಿಡಿದು ಹುಟ್ಟಿದಾತ ಕಾಲಾಗ್ನಿರುದ್ರನಾಗಲಿ,
ಕಾಯವಿಡಿದು ಹುಟ್ಟಿದಾತ ಕಾಮಸಂಹಾರಿಯಾಗಲಿ,
ಕಾಯವಿಡಿದು ಹುಟ್ಟಿದಾತ ಅನಾದಿ ಪರಮೇಶ್ವರನಾಗಲಿ,
ಅರಿವು ಸಾಧ್ಯವಾಗದು ಆರಿಗೆಯು.
ಗುಹೇಶ್ವರಲಿಂಗದಲ್ಲಿ -ನೀನು
ಕಾಯವಿಡಿದು ಕಲ್ಪಿತವ ಹೊದ್ದೆಯೆಂಬುದು,
ಕಾಣ ಬಂದಿತ್ತು ನೋಡಾ ಚೆನ್ನಬಸವಣ್ಣಾ. ॥೪೦೯॥

೧೧೦೪

ಕಾಯವುಳ್ಳನ್ನಕ್ಕ ಶರಣರ ಸಂಗದಿಂದ ಅರಿಯಬೇಕು.
ಜೀವವುಳ್ಳನ್ನಕ್ಕ ಅರಿವಿನ ಮುಖದಿಂದ ಹರಿಯಬೇಕು.
ಅರಿವನ್ನಬರ ಗುಹೇಶ್ವರನೆಂಬ ಕುರುಹಾಯಿತ್ತು. ॥೪೧೦॥

೧೧೦೫

ಕಾಯವೆ ಕಡವಸವಾಗಿ, ಮನವೆ ಯೋಗವಟ್ಟಿಗೆಯಾಗಿ:
ಇಂದ್ರಿಯವಿಸಂಚದಿಂದಾದ ಉಪಮೆಯಯ್ಯಾ !

ಏನೆಂದೆನಬಹುದು ? ಎಂತೆಂದೆನಬಹುದು ?
ಸುಖದ ಸೋಂಕಿನಲಾದ ಸಮಾಧಿಯಯ್ಯಾ !
ಅಂತರಂಗದ ಕಂಥೆ ಚಿಂತೆಗೆಟ್ಟುದು ಬ್ರಹ್ಮ.
ಗುಹೇಶ್ವರಲಿಂಗದಲ್ಲಿ ಸಂಗವಯ್ಯಾ. ॥೪೧೧॥

೧೧೦೬

ಕಾಯವೆಂಬ ಕಂಥೆಯ ತೊಟ್ಟವರು.
ಬ್ರಹ್ಮನಾಗಲಿ ವಿಷ್ಣುವಾಗಲಿ ಈಶ್ವರನಾಗಲಿ
ಅಂಗಾಲ ಕಣ್ಣು ಮೈಯೆಲ್ಲಾ ಕಣ್ಣುಳ್ಳ ನಂದಿವಾಹನ ರುದ್ರನಾಗಲಿ
ಗಂಗಾಧರನಾಗಲಿ ಗೌರೀಪತಿಯಾಗಲಿ
ಮಾಯೆ ಕಾಡದೆ ಬಿಡಳು ನೋಡಾ !
ಕಾಯವೆಂಬ ಕಂಥೆಯ ತೊಟ್ಟು ಕೈಲಾಸದಲ್ಲಿದ್ದಡೆ.
ಅಗ್ಗದ ರುದ್ರರೆನ್ನ ನುಗ್ಗು ನುಗ್ಗು ಮಾಡಿ ನೆಲಕ್ಕೆ ಹಾಯ್ಕಿದಡೆ.
ಬಿದ್ದು ಎದ್ದು ಬಂದು ಗುರುವಿನಿಂದ ಭವದ ಬಳ್ಳಿಯ ಹರಿದೆ ನೋಡಾ.
ಹಿಂದಣ ಭವಕ್ಕಂಜಿ. ಮುಂದೆ ಪರಲೋಕದ ಗತಿಯನೊಲ್ಲೆನೆಂದು
ಜರೆದು ಕಳೆದಡೆ— ಪುಣ್ಯಪಾಪಂಗಳೆರಡೂ ಹೊರಗಾದವು.
ಗುಹೇಶ್ವರನೊಡ್ಡಿದ ಸಂಸಾರಸಾಗರವ ದಾಟಿ
ನಿತ್ಯ ನಿಜನಿವಾಸದ ಮುಂಬಾಗಿಲ ಕಂಡು,
ತಲೆವಾಗಿ ಹೊಕ್ಕೆನಯ್ಯಾ. ॥೪೧೨॥

೧೧೦೭

ಕಾಯವೆಂಬ ಕದಳಿಯ ಹೊಕ್ಕು: ಪ್ರಾಣವೆಂಬ ಗಂಹರದಲ್ಲಿ:
ಸಕಲೇಂದ್ರಿಯವೆಂಬ ಕೋಣೆ ಕೋಣೆಗಳಲ್ಲಿ ತಿರುಗಾಡುತ್ತ ಬರಲಾಗಿ
ಮೇರು ಮಂದಿರದ ತ್ರಿಕೋಣೆಯಲ್ಲಿ ಬೆಳಗಾಯಿತ್ತು !
ಗುಹೇಶ್ವರಲಿಂಗವೆಂಬುದು ರೂಪಾಯಿತ್ತು ಸಂಗನಬಸವಣ್ಣಾ. ॥೪೧೩॥

೧೧೦೮

ಕಾಯವೆಂಬ ಕಲ್ಪಿತವ ಕಳೆದು. ಪ್ರಾಣವೆಂಬ ಸೂತಕವ ಹರಿದು.
ನಿಜಭಕ್ತಿ ಸಾಧ್ಯವಾದಲ್ಲದೆ ಲಿಂಗಪರಿಣಾಮವನೆಯ್ದಿಸಬಾರದು (ವೇಧಿಸಬಾರದು ?)
ಅನು ಮಾಡಿದೆ. ನೀವು ಕೈಕೊಳ್ಳಿ, ಎಂದಡೆ ಅದೇ ಅಜ್ಞಾನ.
ನಮ್ಮ ಗುಹೇಶ್ವರಲಿಂಗಕ್ಕೆ ಕುರುಹಳಿದು ನಿಜ ಉಳಿದವಂಗಲ್ಲದೆ
ಪದಾರ್ಥವ ನೀಡಬಾರದು ಕಾಣಾ ಸಂಗನಬಸವಣ್ಣಾ. ॥೪೧೪॥

೧೧೦೯

ಕಾಯವೆಂಬ ಗ್ರಾಮದೊಳಗೊಂದು ಉದರಾಗ್ನಿ
ಹಸಿವು ತೃಷೆ ಅನ್ನ ಪಾನಾದಿಗಳಾಹುತಿಯೆಂಬ ಹೋಮದ ಕುಳಿಯಿದ್ದು,
ನೇಮಾನೇಮಂಗಳನೆಲ್ಲ ಉಳಿದು ಆಹುತಿಯನಿಕ್ಕಿದರು.
ಕೃಚ್ಛ್ರ ಚಾಂದ್ರಾಯಣ ಮೊದಲಾದ ಷೋಡಶ ಕರ್ಮವೆಂಬ ತಪ,
ಎರಡುನೂರಹದಿನಾರು ತೆರೆದ ನೇಮ ಅರವತ್ತಾರು ಶೀಲ,
ಎಂಬತ್ತೆಂಟು ವ್ರತವೆಂಬೀ ಚತುರ್ವಿಧ ಪ್ರಾಣಘಾತಕದೊಳಿಲ್ಲ
ಗುಹೇಶ್ವರ ನಿಮ್ಮ ಶರಣ ಕಂಡೆಯ್ಯ. ॥೪೧೫॥

೧೧೧೦

ಕಾಯವೆಂಬ ದೇಗುಲದಲ್ಲಿ ಜೀವವೆಂಬ ದೇವರು,
ಕರಣೇಂದ್ರಿಯಂಗಳೆಂಬ ಸ್ಥಾನಿಕರ ಕೈಯಲ್ಲಿ ಪೂಜಿಸಿಕೊಂಬುದು
ಗುಹೇಶ್ವರಲಿಂಗಕ್ಕೆ ದೂರ ! ॥೪೧೬॥

೧೧೧೧

ಕಾಯವೆಂಬ ಮಹಾಕದಳಿಯ ಗೆಲಬಲ್ಲವರನಾರನೂ ಕಾಣೆ–
ಸಂಸಾರವೆಂಬ ಸಪ್ತಸಮುದ್ರ ಬಳಸಿ ಬಂದಿಪ್ಪವು.
ಭವವೆಂಬ ಮಹಾರಣ್ಯದೊಳು,
ಪಂಚೇಂದ್ರಿಯವೆಂಬ ವಿಷದ ಮಳೆ ಸುರುವುತ್ತಿಪ್ಪುದು.
ಕೋಪವೆಂಬ ಪರ್ಬುಲಿ ಮೊರೆವುತ್ತಿಪ್ಪುದು.
ಅಷ್ಟಮದವೆಂಬ ಮದಗಜಂಗಳು ಬೀದಿವರಿಯುತ್ತಿಪ್ಪುವು.
ಕಾಮವೆಂಬ ಕೆಂಡದ ಮಳೆ-ಅಡಿಯಿಡಬಾರದು.
ಮತ್ಸರವೆಂಬ ಮಹಾಸರ್ಪಂಗಳು ಕಡಿಯನುಗುಳುತ್ತಿಪ್ಪವು.
ಆಸೆಯೆಂಬ ಪಾಪಿಯ ಕೂಸು ಹಿಸಿಹಿಸಿದು ತಿನ್ನುತ್ತಿಪ್ಪುದು.
ತಾಪತ್ರಯವೆಂಬ ಮೂರಂಬಿನಸೋನೆ ಸುರಿವುತ್ತಿಪ್ಪುದು.
ಅಹಂಕಾರವೆಂಬ ಗಿರಿಗಳು ಅಡ್ಡ ಬಿದ್ದಿಪ್ಪವು.
ಪಂಚಭೂತಗಳೆಂಬ ಭೂತಂಗಳ ಭಯ-ದಿಟ್ಟಿಸಬಾರದು.
ಮಾಯೆಯೆಂಬ ರಕ್ಕಸಿ ಹಸಿಯ ತಿನುತಿಪ್ಪಳು
ವಿಷಯವೆಂಬ ಕೂಪ–ಬಳಸಬಾರದು.
ಮೋಹವೆಂಬ ಬಳ್ಳಿ–ಕಾಲ ಕುತ್ತಬಾರದು.
ಲೋಭವೆಂಬ ಮಸೆದಡಾಯುಧ–ಒರೆ ಉಚ್ಚಬಾರದು.
ಇಂತಪ್ಪ ಕದಳಿಯ ಹೊಗಲರಿಯದೆ

ದೇವದಾನವ ಮಾನವರೆಲ್ಲರೂ, ಮತಿಗೆಟ್ಟು ಮರುಳಾಗಿ ಹೆರೆದೆಗೆದು ಓಡಿದರು.
ಅಂಗಾಲ ಕಣ್ಣವರು ಮೈಯೆಲ್ಲ ಕಣ್ಣವರು ತಲೆಬಾಲಗೆಟ್ಟರು.
ನಾನು ಈ ಕದಳಿಯ ಹೊಕ್ಕು ಹೊಯ್ದಾಡಿ,
ಮುಳ್ಳು ಮಸೆ ಮುಟ್ಟದೆ ಕಳಿವರಿದು, ಗೆಲಿದು, ಉತ್ತರಿಸಿ;
ಗುಹೇಶ್ವರನೆಂಬ ಲಿಂಗದ ನಿಜಸಮಾಧಿಯಲ್ಲಿ ನಿಂದು,
ಪರವಶನಾಗಿ ನಿರಾಳಕ್ಕೆ ನಿರಾಳವಾಗಿದ್ದೆನಯ್ಯಾ ! ॥೪೧೭॥

೧೧೧೨

ಕಾಯವೆ ಸಕಲ, ಪ್ರಾಣವೆ ಸಕಲ–ನಿಷ್ಕಲ,
ಭಾವವೆ ನಿಷ್ಕಲಲಿಂಗವಾಗಿದ್ದ ಮತ್ತೆ
ಬೇರೆ ಆಯತ ಸ್ವಾಯತ ಸನ್ನಹಿತವೆಂಬುದಿಲ್ಲ ನೋಡಾ.
ಶಿವ–ಶಕ್ತಿ (ಭಕ್ತಿ–ಶಕ್ತಿ ?) ಸಂಬಂಧವೆ ದೇಹದೇಹಿಗಳಾಗಿದ್ದ ಬಳಿಕ
ಗುಹೇಶ್ವರಲಿಂಗದಲ್ಲಿ,
ಬೇರೊಂದು ಕುರುಹುವಿಡಿದು ಅರಿಯಲೇಕಯ್ಯಾ ಚನ್ನಬಸವಣ್ಣಾ ? ॥೪೧೮॥

೧೧೧೩

ಕಾಯಶುದ್ಧವಾಯಿತ್ತೆಂದಡೆ ಲಿಂಗ ನೆಲೆಗೊಳ್ಳದು.
ಜೀವ ಶುದ್ಧವಾಯಿತ್ತೆಂದಡೆ ಲಿಂಗ ನೆಲೆಗೊಳ್ಳದು.
ಭಾವ ಶುದ್ಧವಾಯಿತ್ತೆಂದಡೆ ಲಿಂಗ ನೆಲೆಗೊಳ್ಳದು.
ಗುಹೇಶ್ವರಲಿಂಗದಲ್ಲಿ ಶುದ್ಧ ಸುಯಿಧಾನಿಯಾದೆನೆಂದಡೆ
ನಿಜವು ಸಾಧ್ಯವಾಗದು ಕೇಳು ಅವ್ವಾ. ॥೪೧೯॥

೧೧೧೪

ಕಾಯ ಸತಿಯೆಂದು ಹೇಸಿ ಕಳೆದೆ.
ವಾಯದ ಮನ ಮಾಯೆಯೆಂದು ಹೇಸಿ ಬಿಟ್ಟೆ.
ವಾಯದ ಸತಿ ಎಂಬ ಸಂದೇಹವೆಮಗೇಕೆ ?
ಸತಿಯರ ಗೋಷ್ಠಿ ವಿಷ ಕಾಣವ್ವ.
ಗುಹೇಶ್ವರಲಿಂಗದಲ್ಲಿ ನಿನ್ನ ಪತಿಯ ಕುರುಹ ಹೇಳಾ ಎಲೆ ಅವ್ವಾ ? ॥೪೨೦॥

೧೧೧೫

ಕಾಯಸದೆ ನೆನೆದಡೆ, ಕಲ್ಪಿತವಿಲ್ಲದ ಪುರುಷ ಬಂದನೆನಗೆ ನೋಡಾ.
ಕಲ್ಪಿತವಿಲ್ಲದೆ ನೆರೆದಡೆ ಭಾವಿಸಲಿಲ್ಲದ ಸುಖವು ದೊರಕಿತ್ತು ನೋಡಾ.
ಗುಹೇಶ್ವರನೆಂಬ ಲಿಂಗವನರಿದ ಬಳಿಕ ನೀ ನಾನೆಂಬುದಿಲ್ಲ ನೋಡಾ. ॥೪೨೧॥

೧೧೧೬

ಕಾಲ, – ಕಾಲವರವತ್ತು; ಕಾಲ ಕಾಲವನೆ ಅರಿವುದು.
ಕಾಲ – ಕಾಲವೈವತ್ತು; ಕಾಲ ಕಾಲವನೆ ಅರಿವುದು.
ಕಾಲ – ಕಾಲ ನಾಲ್ವತ್ತು; ಕಾಲ ಕಾಲವನೆ ಅರಿವುದು.
ಕಾಲ – ಕಾಲ ಮೂವತ್ತು; ಕಾಲ ಕಾಲವನೆ ಅರಿವುದು.
ಕಾಲ – ಕಾಲ ಇಪ್ಪತ್ತು; ಕಾಲ ಕಾಲವನೆ ಅರಿವುದು.
ಕಾಲ – ಕಾಲ ಹತ್ತು; ಕಾಲ ಕಾಲವನೆ ಅರಿವುದು.
ಇಂತೀ ಕಾಲಂಗಳ ಕಾಲವನರಿವಡೆ
ಗುಹೇಶ್ವರಲಿಂಗದಲ್ಲಿ ಹೇಳು ಚೆನ್ನಬಸವಣ್ಣಾ ? ||೪೨೨||

೧೧೧೭

ಕಾಲನ ಕೊಂದಾತನಲ್ಲದೆ ಶುದ್ಧಪ್ರಸಾದಿಯಲ್ಲ.
ಕಾಮನ ತಿಂದಾತನಲ್ಲದೆ ಸಿದ್ಧಪ್ರಸಾದಿಯಲ್ಲ.
ತ್ರಿಪುರವ ಸುಟ್ಟಾತನಲ್ಲದೆ ಪ್ರಸಿದ್ಧಪ್ರಸಾದಿಯಲ್ಲ.
ಕೆಸರಿನಲ್ಲಿ ಕಿಚ್ಚನಿಕ್ಕಿ ಬಸುರ ಬಡಿದುಕೊಂಡಾತಗಲ್ಲದೆ
ಈ ತ್ರಿವಿಧ ಪ್ರಸಾದವಿಲ್ಲ ಕಾಣಾ ಗುಹೇಶ್ವರಾ. ||೪೨೩||

೧೧೧೮

ಕಾಲಾಗ್ನಿಯೆಂಬ ಕಾಡುಗಿಚ್ಚೆದ್ದು ಲೋಕವ ಸುಟ್ಟಿತ್ತೆಂದಡೆ
ಶಿವಶರಣರಂಜರು.
ಶಶಿಧರ ಮುನಿದು ಬಿಸುಗಣ್ಣ ತೆಗೆದಡೆ
ಶಿವಶರಣರದ ಮನಸಿಗೆ ತಾರರು.
ಅಸಮಾಕ್ಷಲಿಂಗವ ತಮ್ಮ ವಶಕ್ಕೆ ತಂದ ಶರಣರು.
ಮುನಿದು ಉರಿಗಣ್ಣ ತೆಗೆದಡೆ,
ಚತುರ್ದಶ ಭುವನದೊಳಗೆ ಆರೂ ಗುರಿಯಲ್ಲ.
ಗುಹೇಶ್ವರಾ ನಿಮ್ಮ ಅರಿವಿನ ಬೆಳಗು ಬಿಸಿಯಾದಡೆ
ಸಿದ್ಧರಾಮಯ್ಯದೇವರೆಂಬ ಶಿವಯೋಗಿಯ
ಹೃದಯವೆ ಗುರಿ. ||೪೨೪||

೧೧೧೯

ಕಾಲು ಕರ ಕಾಯ ಜೀವದೊಳಗಾಡುವ
ಭಾವವೇ ದೈವವೆ ?
'ನಾನು' ಎಂಬುದ ತಾನು ಅಳಿದಲ್ಲಿ ಗುಹೇಶ್ವರಲಿಂಗವು ತಾನೆ ! ||೪೨೫||

೧೧೨೦

ಕಾಲು ಮುಖವ ತೊಳೆದುಕೊಂಡ ಬಳಿಕ ಮಜ್ಜನಕ್ಕೆರೆವಿರಿ,
ತಾನು ಲಿಂಗವೊ ? ತನ್ನ ಕೈಯದು ಲಿಂಗವೊ ?
ಆವುದು ಲಿಂಗ ಹೇಳಿರೆ ?
ಲಿಂಗಸ್ಥಲವನರಿಯದೆ.
ಎರಡರಿಂದ ಕೆಟ್ಟರು ಗುಹೇಶ್ವರಾ. ॥೪೨೬॥

೧೧೨೧

ಕಿಚ್ಚಿಗೆ ಮೈಹುಗುಳು ಹುಟ್ಟಿತ್ತು.
ಉದಕಕ್ಕೆ ಚಳಿಯಾಗಿ ಸ್ಫಟಿಕ ಗಿರಿಯಲ್ಲಿ ಹಣ್ಣು ಹುಟ್ಟಿತ್ತು !
ಅಟ್ಟಿತ್ತೊಂದು ತಲೆ ಹೋ ! ಹಣ್ಣಿನದ (ನೆಯ್ದೆ ?) ನುಂಗಿತ್ತು ರೆ !
ಹೆಂಡತಿಯಿಲ್ಲದ ಗಂಡಂಗೆ ಅರುವಾನಿಸ ಮಕ್ಕಳು.
ಅಖಂಡಿತ ಗುಹೇಶ್ವರಾ ಹಾ ನಿರಾಳರೆ. ॥೪೨೭॥

೧೧೨೨

ಕಿಚ್ಚು ಬಯಲೆಂದಡದು ನಿರವಯವಕೆ ಹತ್ತಿ ಹೊತ್ತಿದುದುಂಟೆ ?
ಅರಿವು ನಿಜವೆಂದಡೆ ಅಡಗುವುದಕ್ಕೊಂದು ನಾಮ ಉಂಟು.
ಅಗ್ನಿರೂಪಿನಲ್ಲಿ ಹುಟ್ಟಿ ಆ ರೂಪ ದಗ್ಧವ ಮಾಡಿದಲ್ಲದೆ
ತನ್ನ ಹೊದ್ದಿಗೆ ಕೆಡದು.
ಆ ಉಭಯವನರಿವನ್ನಬರ ಕೈಯ ಕುರುಹು.
ಅರಿವನ ಜ್ಞಾನ ಪರಿಪೂರ್ಣವಾಗಿರಬೇಕು.
ನಮ್ಮ ಗುಹೇಶ್ವರಲಿಂಗದಲ್ಲಿ ಆ ಉಭಯವ ತಿಳಿವನ್ನಬರ
ತನ್ನ ಹಿಂಗಿರಬೇಕು ಕಾಣಾ. ಎಲೆ ಅಂಬಿಗರ ಚೌಡಯ್ಯ. ॥೪೨೮॥

೧೧೨೩

ಕಿರಿಯರಾದಡೇನು ? ಹಿರಿಯರಾದಡೇನು ?
ಅರಿವಿಂಗೆ ಹಿರಿದು ಕಿರಿದುಂಟೆ ?
ಆದಿ ಅನಾದಿ ಇಲ್ಲದಂದು.
ಅಜಾಂಡ ಬ್ರಹ್ಮಾಂಡ ಕೋಟಿಗಳುದಯವಾಗದಂದು
ಗುಹೇಶ್ವರಲಿಂಗದಲ್ಲಿ ನೀನೊಬ್ಬನೆ ಮಹಾಜ್ಞಾನಿ ಎಂಬುದು
ಕಾಣಬಂದಿತ್ತು ಕಾಣಾ ಚೆನ್ನಬಸವಣ್ಣಾ. ॥೪೨೯॥

೧೧೨೪

ಕೀರ್ತಿವಾರ್ತೆಗೆ ಮಾಡುವಾತ ಭಕ್ತನಲ್ಲ.
ಪರರ ಭೋಧಿಸಿಕೊಂಡುಂಬಾತ ಜಂಗಮವಲ್ಲ.
ತ್ರಿಸಂಧ್ಯಾಕಾಲವೆಂದು ಪ್ರಸಾದವನಿಕ್ಕುವಾತ ಗುರುವಲ್ಲ.
ತ್ರಿಸಂಧ್ಯಾಕಾಲವೆಂದು ಪ್ರಸಾದವ ಕೊಂಬಾತ ಶಿಷ್ಯನಲ್ಲ.
ಪರಗಮನವಿರಹಿತ ಜಂಗಮ, ಕಾಲಕರ್ಮವಿರಹಿತ ಪ್ರಸಾದಿ,
ಪ್ರಸಾದವ ಇಕ್ಕಿಯೂ ಇಕ್ಕದಾತ ಗುರು, ಕೊಂಡೂ ಕೊಳ್ಳದಾತ ಶಿಷ್ಯ.
ಆ ಭಕ್ತನಲ್ಲಿಯೆ ನಿಕ್ಷೇಪಿಸಿ ನಿರ್ಗಮನಿಯಾಗಿ ಹೋದಾತ ಜಂಗಮ.
ಆ ಜಂಗಮಕ್ಕೆ ಅರ್ಥಪ್ರಾಣಾಭಿಮಾನವಿಡಿದು ಮಾಡುವಾತ ಭಕ್ತ–
ಇಂತೀ ಚತುರ್ವಿಧದನುವನು, ಗುಹೇಶ್ವರಲಿಂಗದನುವನು
ವೇಷಧಾರಿಗಳೆತ್ತ ಬಲ್ಲರು ಬಸವಣ್ಣನೊಬ್ಬನೆ ಬಲ್ಲನಲ್ಲದೆ. ॥೪೩೦॥

೧೧೨೫

ಕುಂಡಲಿಗನ ಕೀಟದಂತೆ, ಮೈ ಮಣ್ಣಾಗದಂತೆ
ಇದ್ದೆಯಲ್ಲಾ ಬಸವಣ್ಣಾ.
ಜಲದೊಳಗಣ ತಾವರೆಯಂತೆ ಹೊದ್ದಿಯೂ ಹೊದ್ದದಂತೆ
ಇದ್ದೆಯಲ್ಲಾ ಬಸವಣ್ಣಾ.
ಜಲದಿಂದಲಾದ ಮೌಕ್ತಿಕದಂತೆ,
ಜಲವು ತಾನಾಗದಂತೆ ಇದ್ದೆಯಲ್ಲಾ ಬಸವಣ್ಣಾ.
ಗುಹೇಶ್ವರಲಿಂಗದ ಆಣತಿವಿಡಿದು,
ತನುಗುಣ ಮತ್ತರಾಗಿದ್ದ ಐಶ್ವರ್ಯಾಂಧಕರ
ಮತವನೇನ ಮಾಡಬಂದೆಯಯ್ಯಾ, ಸಂಗನ ಬಸವಣ್ಣಾ ? ॥೪೩೧॥

೧೧೨೬

ಕುರುಹುಳ್ಳನ್ನಕ್ಕ ಸಮಯದ ಹಂಗು,
ಅರಿದಹೆನೆಂಬನ್ನಕ್ಕ ಆತ್ಮದ ಹಂಗು,
'ಅಲ್ಲ' 'ಅಹುದು' ಎಂಬನ್ನಕ್ಕ ಎಲ್ಲರ ಹಂಗು.
ಗುಹೇಶ್ವರನೆಂಬನ್ನಕ್ಕ
ಲಿಂಗದ ಹಂಗು ಬೇಕು ಘಟ್ಟಿವಾಳಣ್ಣಾ. ॥೪೩೨॥

೧೧೨೭

ಕುಲದೊಳಗೆ ಹುಟ್ಟಿ ಕುಲವ ಬೆರಸದೆ
ತಮ್ಮ ನಿಲವ ಬಲಿದಿಪ್ಪವರು ಇನ್ನಾರು ಹೇಳಾ ?

ಹಬ್ಬಿದ ಮೂರು ಬೆಟ್ಟಕ್ಕೆ ತನ್ನ ಮನವ ಹಬ್ಬಲೀಯದೆ
ಲಿಂಗ ಜಂಗಮಕ್ಕೆ ಸವೆಸಿ ಸ್ವಯಲಿಂಗವಪ್ಪರಿನ್ನಾರು ಹೇಳಾ ?
ಸ್ವಯೋ ಲಿಂಗ ಸ್ವಯೋ ಶರಣ ಸ್ವಯೋ ಭೋಗವೆಂದುದಾಗಿ,
ಗುಹೇಶ್ವರಾ–ನಿಮ್ಮ ಶರಣ ಸಂಗನಬಸವಣ್ಣಂಗೆ
ನಮೋ ನಮೋ ಎಂಬೆನು. ||೪೩೩||

೧೧೨೮

ಕೂಡಲಿಲ್ಲದ ಅಗಲಲಿಲ್ಲದ ಘನವ,
ಕೂಡುವ ಪರಿ ಎಂತವ್ವಾ ?
ಗುಹೇಶ್ವರಲಿಂಗವ ಬೇರೆ ಮಾಡಿ
ಬೆರಸಬಾರದು ಕೇಳಾ ಕೆಳದಿ. ||೪೩೪||

೧೧೨೯

ಕೂರ್ಮನ ಶಿಶುವಿನ ಸ್ನೇಹದಂತಿರಬೇಡಾ ಸಂಗನಬಸವಣ್ಣಾ ?
ಕಾಕಪಿಕಸಂಧಾನದಂತಿರಬೇಡಾ ಸಂಗನಬಸವಣ್ಣಾ ?
ಕೊಂಬ ತಪ್ಪದೆ ಹಾಯ್ವ ಕಪಿಯಂತಿರಬೇಡಾ ಸಂಗನಬಸವಣ್ಣಾ ?
ನೀರು ಕ್ಷೀರವ ಭೇದಿಸಿ ತೆಗೆವ ಹಂಸೆಯಂತಿರಬೇಡಾ ಸಂಗನಬಸವಣ್ಣಾ ?
ಗುಹೇಶ್ವರಲಿಂಗದಲ್ಲಿ ಅವಧಾನ ತಪ್ಪಿ,
ಮರಳಿ ಅರಸಿದಡುಂಟೆ ಹೇಳಾ ಸಂಗನಬಸವಣ್ಣಾ ? ||೪೩೫||

೧೧೩೦

ಕೃತಯುಗದಲ್ಲಿ ನಾನು ಭಕ್ತಿ ಕಾರಣ
ಸ್ಥೂಲಕಾಯನೆಂಬ ಗಣೇಶ್ವರನಾಗಿರ್ದೆನಯ್ಯಾ.
ತ್ರೇತಾಯುಗದಲ್ಲಿ ನಾನು ಭಕ್ತಿ ಕಾರಣ
ಶೂನ್ಯಕಾಯನೆಂಬ ಗಣೇಶ್ವರನಾಗಿರ್ದೆನಯ್ಯಾ.
ದ್ವಾಪರದಲ್ಲಿ ನಾನು ಭಕ್ತಿ ಕಾರಣ
ಅನಿಮಿಷನೆಂಬ ಗಣೇಶ್ವರನಾಗಿರ್ದೆನಯ್ಯಾ.
ಕಲಿಯುಗದಲ್ಲಿ ನಾನು ಭಕ್ತಿ ಕಾರಣ
ಅಲ್ಲಮಪ್ರಭುವೆಂಬ ಗಣೇಶ್ವರ (ಜಂಗಮ ?)ನಾಗಿರ್ದೆ
ಕಾಣಾ ಗುಹೇಶ್ವರಾ. ||೪೩೬||

೧೧೩೧

ಕೃತಯುಗದಲ್ಲಿ ನೀನು
ಸ್ಕಂದನೆಂಬ ಗಣೇಶ್ವರನಾಗಿರ್ದುದ ಬಲ್ಲೆ ನಾನು.
ತ್ರೇತಾಯುಗದಲ್ಲಿ ನೀನು
ನೀಲಲೋಹಿತನೆಂಬ ಗಣೇಶ್ವರನಾಗಿರ್ದುದ ಬಲ್ಲೆ ನಾನು.
ದ್ವಾಪರದಲ್ಲಿ ನೀನು
ವೃಷಭನೆಂಬ ಗಣೇಶ್ವರನಾಗಿರ್ದುದ ಬಲ್ಲೆ ನಾನು.
ಕಲಿಯುಗದಲ್ಲಿ ನೀನು
ಬಸವನೆಂಬ ಗಣೇಶ್ವರನಾಗಿ, ಸರ್ವಾಚಾರ ಸಂಪನ್ನನಾಗಿ,
ಭಕ್ತಿಜ್ಞಾನವ ಕಂದೆರವೆಯ ಮಾಡಿ,
ಶಿವಾಚಾರದ ಘನದ ಬೆಳವಿಗೆಯ ಮಾಡಿ,
ಶಿವಭಕ್ತಿಯ ಧ್ವಜವನೆತ್ತಿಸಿ ಮರ್ತ್ಯಲೋಕದೊಳಗೆ
ಹರಹಿದ ಭೇದವ ಭೇದಿಸಿ ನೋಡಿ ಆನು ಅರಿದೆ.
ಗುಹೇಶ್ವರ ಸಾಕ್ಷಿಯಾಗಿ ನಿನ್ನ ಮಹಾತ್ಮೆಗೆ
ನಮೋ ನಮೋ ಎನುತಿರ್ದೆನು ಕಾಣಾ ಸಂಗನಬಸವಣ್ಣಾ. ॥ ೪೩೭॥

೧೧೩೨

ಕೃತ್ಯಕ್ಕೆ ಬಾರದ ಲಿಂಗವ ಕೃತ್ಯಕ್ಕೆ ತಂದವರಾರೊ ?
ವಾಙ್ಮನಕ್ಕಗೋಚರ ಲಿಂಗ, ಬೊಟ್ಟಿಡಲೆಡೆದೆರಹಿಲ್ಲದ ಲಿಂಗ !
ಪರಾತ್ಪರಗುರು ಕೊಟ್ಟ, ಶಿಷ್ಯ ತೆಗೆದುಕೊಂಡ ಎಂಬ
ರಚ್ಚೆಯ ಭಂಡರ ನೋಡಾ ಗುಹೇಶ್ವರಾ. ॥ ೪೩೮॥

೧೧೩೩

ಕೆಂಡದ ಗಿರಿಯ ಅರಗಿನ ಬಾಣದಲೆಚ್ಚಡೆ
ಮರಳಿ ಆ ಬಾಣವನರಸಲುಂಟೆ ?
ಮಂಜಿನ ಶಿವಾಲಯಕ್ಕೆ ಬಿಸಿಲ ಕಳಸವುಂಟೆ ?
ಗುಹೇಶ್ವರನೆಂಬ ಲಿಂಗವನರಿದ ಬಳಿಕ
ಮತ್ತೆ ಮರಳಿ ನೆನೆಯಲುಂಟೆ ? ॥ ೪೩೯॥

೧೧೩೪

ಕೆಟ್ಟ ಒಡವೆಯನರಸ ಹೋಗಿ,
ಆ ಕೆಟ್ಟ ಒಡವೆಯ ಕಂಡ ಬಳಿಕ, ಆರನೂ ಕೇಳಲಿಲ್ಲ, ಹೇಳಲಿಲ್ಲ.

ಅದು ಮುನ್ನಲಿದ್ದ ಹಾಂಗೆ ಆಯಿತ್ತು.
ಅಂತು ಶರಣನು ಆ ಪರಿಯಲ್ಲಿ ತನ್ನ ಸ್ವಯಾನುಭಾವದಿಂದ
ತನ್ನ ನಿಜವ ತಾ ಕಂಡು ಸ್ವೈರಗಾಗಿರಲು.
ಅದನ್ನು ಅಜ್ಞಾನಿಗಳು ಬಲ್ಲರೆ ಗುಹೇಶ್ವರಾ ? ||೪೪೦||

೧೧೩೫

ಕೆರೆ ದೇಗುಲಂಗಳೆಲ್ಲವು ಹಿಂದಣ ಅಡಿವಜ್ಜೆಗೆ ಒಳಗು.
ಕರ್ಮಕಾಂಡ ಯೋಗಂಗಳೆಲ್ಲವು ಭವದ ತೆಕ್ಕೆಗೆ ಒಳಗು.
ಹಿಂದಣ ಮುಂದಣ ಸಂದನಳಿದು
ಗುಹೇಶ್ವರಲಿಂಗದಲ್ಲಿ ಸಲೆ ಸಂದಿರಬೇಕು ಸಿದ್ಧರಾಮಯ್ಯಾ. ||೪೪೧||

೧೧೩೬

ಕೆರೆಯ ಕಟ್ಟಿಸುವ ಒಡ್ಡನ ಪ್ರತಾಪವನೇನೆಂಬೆನಯ್ಯಾ.
ನೆಲನನಗಿದು ಜಲವ ಮೊಗೆದಿಹೆನೆಂಬ ಬಳಲಿಕೆಯ ನೋಡಾ.
ಒಂದು ಕಲ್ಲನು ಕಡಿದು ಮತ್ತೊಂದು ಕಲ್ಲಿಗೆ
ಭೋಗವ ಕೊಟ್ಟಿಹೆನೆಂಬ ಅಜ್ಞಾನವಿದೇನೊ ?
ಗುಹೇಶ್ವರಾ ಈ ಇರವಿನ ಪರಿಗೆ ಬೆರಗಾದೆನು ! ||೪೪೨||

೧೧೩೭

ಕೆಲಬರು ಕಂಡೆವೆಂಬರು, ಕೆಲಬರು ಕಾಣೆವೆಂಬರು.
ತಾರಾಮಂಡಲವೆ ? ಸೂರ್ಯಮಂಡಲವೆ ?
ಗುಹೇಶ್ವರನಿಪ್ಪುದು ಚಂದ್ರಗಿರಿಪಟ್ಟಣವು ! ||೪೪೩||

೧೧೩೮

ಕೆಳಗೇಳು ಭುವನಂಗಳಿಲ್ಲದಂದು. ಮೇಲೇಳು ಭುವನಂಗಳಿಲ್ಲದಂದು. –
ಅಂದು ಆದ ಗುರು. ಅಂದು ಆದ ಲಿಂಗ. ಅಂದು ಆದ ಜಂಗಮ.
ಅಂದು ಆದ ಪ್ರಸಾದ, ಅಂದು ಆದ ಪಾದೋದಕ.
ಇಂದಿನದಾವುದೂ ಹೊಸತಿಲ್ಲಯ್ಯಾ.
ಶಶಿಧರಂಗೆ ವೃಷಭನಾಗಿದ್ದಂದು
ಗುಹೇಶ್ವರನ ಶರಣ ಸಂಗನಬಸವಣ್ಣನಂದೆ ಸಾಹಿತ್ಯನು. ||೪೪೪||

೧೧೩೯

ಕೆಳಗೇಳು ಲೋಕಂಗಳಿಲ್ಲದ ಮುನ್ನ, ಮೇಲೇಳು ಲೋಕಂಗಳಿಲ್ಲದ ಮುನ್ನ
ಸಹಸ್ರ (ಸಮಸ್ತ ?) ಬ್ರಹ್ಮಾಂಡಗಳಿಲ್ಲದ ಮುನ್ನ, ಅಲ್ಲಿಂದತ್ತತ್ತ;
ಬಸವಣ್ಣಾ ನೀನು ಲಿಂಗಭಕ್ತ, ಜಂಗಮಪ್ರಾಣಿ !
ಶಶಿಧರನ ಶರಣಂಗೆ ವೃಷಧರ ಸ್ವಾಯತವಾಗಿ,
ನಮ್ಮ ಗುಹೇಶ್ವರಲಿಂಗಕ್ಕೆ ಸಂಗನಬಸವಣ್ಣನೆ ಭಕ್ತನೆಂದರಿದು
ನಾನು ಬಸವಣ್ಣನ ಶ್ರೀಪಾದಕ್ಕೆ ನಮೋ ನಮೋ ಎನುತಿರ್ದೆನು. ॥೪೪೫॥

೧೧೪೦

ಕೈಯಲ್ಲಿ ಕಟ್ಟುವರು ಕೊರಳಲ್ಲಿ ಕಟ್ಟುವರು,
ಮೈಯಲ್ಲಿ ಕಟ್ಟುವರು ಮಂಡೆಯಲ್ಲಿ ಕಟ್ಟುವರು,
ಮನದಲ್ಲಿ ಲಿಂಗವ ಕಟ್ಟರಾಗಿ !
ಆದ್ಯರು ಹೋದರೆಂದು ವಾಯಕ್ಕೆ ಸಾವರು.
ಸಾವುದು ವಿಚಾರವೆ ಗುಹೇಶ್ವರಾ ? ॥೪೪೬॥

೧೧೪೧

ಕೈಯಲ್ಲಿ ಡಾಣೆ ಮನದಲ್ಲಿ ಕ್ರೋಧ ವಚನದಲ್ಲಿ ಕಿಂಕಲ,
ಲಿಂಗದ ವಾರ್ತೆ ನಿನಗೇಕೆ ಹೇಳಾ ಬಸವಾ ?
ಜಂಗಮವೆ ಲಿಂಗವೆಂಬ ಶಬ್ದಸಂದೇಹಸೂತಕಿ ನೀನು,
ಸಜ್ಜನ ಸದ್ಭಕ್ತಿಯ ಮಾತು ನಿನಗೇಕೆ ಹೇಳಾ ಬಸವಾ ?
ಕಬ್ಬುನದ ರೂಪು ಪರುಷವ ಮುಟ್ಟಿದಡೆ ಹೊನ್ನಾಯಿತ್ತಲ್ಲದೆ
ಪರುಷವಪ್ಪುದೆ ಹೇಳಾ ಬಸವಾ ?
ಗುಹೇಶ್ವರನೆಂಬ ಪರುಷದ ಪುತ್ಥಳಿಯನರಿಯಬಲ್ಲಡೆ
ನಿನ್ನ ನೀನೆ ತಿಳಿದು ನೋಡಾ ಸಂಗನಬಸವಣ್ಣಾ. ॥೪೪೭॥

೧೧೪೨

ಕೈಲಾಸಕ್ಕೆ ಹೋದವರೆಲ್ಲ ಕೈಸೆರೆಯಾದರು.
ಲಿಂಗದಲ್ಲಿ ಲೀಯವಾದವರೆಲ್ಲ ಬಂಧನಕ್ಕೊಳಗಾದರು.
ಸಾಲೋಕ್ಯ ಸಾಮೀಪ್ಯ ಸಾರೂಪ್ಯ ಸಾಯುಜ್ಯದವರೆಲ್ಲ
ಎಡೆಯಾಡುತ್ತಿದ್ದರು.
ಗುಹೇಶ್ವರಾ ನಿಮ್ಮ ಶರಣ ಸಂಗನಬಸವಣ್ಣ
ಜಂಗಮಪ್ರಸಾದಿಯಾದನಾಗಿ ಸ್ವಯಲಿಂಗವಾದ ! ॥೪೪೮॥

೧೧೪೩

ಕೈಲಾಸವೆಂಬುದೊಂದು ಬೆಳ್ಳಿಯ ಬೆಟ್ಟ.
ಅಲ್ಲಿದ್ದಾತ ರುದ್ರನೊಬ್ಬ.
ಆ ಬೆಟ್ಟಕ್ಕೂ ಆ ರುದ್ರಂಗೆಯೂ
ಪ್ರಳಯವುಂಟೆಂಬುದ
ಗುಹೇಶ್ವರಾ ನಿಮ್ಮ ಶರಣ ಬಲ್ಲನು. ॥೪೪೯॥

೧೧೪೪

ಕೊಂಡ ಆಹಾರದ ರಸವ ಕಟ್ಟಿ,
ಯೋಗಿಗಳಾದೆವೆಂಬ
ಭಂಡರು ನೀವು ಕೇಳಿರೊ.
ಜೋಡು ದೇಹದ ಮಲಿನವ ಕಟ್ಟಿ ಮಾಯೆಯ ಗೆದ್ದಿಹೆವೆಂಬರು.
ಬಿಂದುವಿನ ಸಂಚವನಿವರೆತ್ತ ಬಲ್ಲರು ?
ಮನದ ಮಲಿನವೆ ಮಾಯೆ. ಮನದ ಸಂಚವೆ ಬಿಂದು.
ಇಂತಪ್ಪ ಬಿಂದುವ ಕಟ್ಟಿ ಮಾಯೆಯ ಗೆಲಲರಿಯದವರು
ಅವರೆತ್ತಣ ಯೋಗಿಗಳು ಗುಹೇಶ್ವರಾ ? ॥೪೫೦॥

೧೧೪೫

ಕೋಪ–ತಾಪವ ಬಿಟ್ಟು ಭ್ರಾಂತಿಭ್ರಮೆಯಂ ಬಿಟ್ಟು
ಜಂಗಮವಾಗಬೇಕು ಕಾಣಿರೆ ಮರುಳುಗಳಿರಾ
ಇಂತೀ ಕಡುಲೋಭದ ರುಚಿ ಹಿಂಗಿ
ಜಂಗಮವಾದಲ್ಲದೆ. ಭವ ಹಿಂಗದು ಕಾಣಾ ಗುಹೇಶ್ವರ. ॥೪೫೧॥

೧೧೪೬

ಕೋಪತಾಪವೆಂಬುದು ಅರಿವಿನೊಳಗೆ.
ಭಕ್ತಿ ಯುಕ್ತಿ ಎಂಬುದು ನಿತ್ಯದೊಳಗೆ.
ಭಾವದ ಬಗೆಗೆ ಬಣ್ಣವಿಟ್ಟುಕೊಂಡಡೆ
ನಿಭ್ರಾಜಿಕಂಗೆ ಅದು ಸಹಜವೆ ?
ಬಂದ ಶರಣರ ನಿಲವನರಿದು.
ಸಂದುಸಂಶಯವಳಿದು ನಂಬದಿದ್ದಡೆ.
ಹಿಂದು ಮುಂದಾಗಿ ಹೋಹನು ಕಾಣಾ
ನಮ್ಮ ಗುಹೇಶ್ವರಲಿಂಗವು. ॥೪೫೨॥

೧೧೪೭

ಕೌಪ ಕಾಷಾಯಾಂಬರವ ಕಟ್ಟಿ,
ಮಂಡೆ ಬೋಳಾದಡೇನಯ್ಯಾ.
ಎನ್ನಲ್ಲಿ ನಿಜವಿಲ್ಲದನ್ನಕ್ಕ ?
ಹೊನ್ನು ಹೆಣ್ಣು ಮಣ್ಣು ತ್ರಿವಿಧವ ತೊರೆದಡೇನಯ್ಯಾ
ಮನದಲ್ಲಿ ವ್ರತಿಯಾಗದನ್ನಕ್ಕ ?
ಹಸಿವು ತೃಷೆ ವ್ಯಸನಾದಿಗಳ ಬಿಟ್ಟಡೇನಯ್ಯಾ
ಅರ್ಥದಿಚ್ಛೆ ಮನದಲ್ಲಿ ಹಿಂಗದನ್ನಕ್ಕ ?
ಆನು ಜಂಗಮವೆ ?
ಆನು ಹಿರಿಯನಾದೆನಲ್ಲದೆ ಆನು ಜಂಗಮವೆ ?
ಒಡಲಿಲ್ಲದಾತ ಬಸವಣ್ಣ. ಪ್ರಾಣವಿಲ್ಲದಾತ ಬಸವಣ್ಣ.
[ಎನ್ನ] ಬಸವಣ್ಣನಾಗಿ ಹುಟ್ಟಿಸದೆ
ಪ್ರಭುವಾಗಿ ಏಕೆ ಹುಟ್ಟಿಸಿದೆ ಗುಹೇಶ್ವರಾ ? ॥೪೫೩॥

೧೧೪೮

ಕ್ರಿಯಾದೀಕ್ಷೆ ಮಂತ್ರದೀಕ್ಷೆ ಹೀನರಿಗೆ
ಜಂಗಮ ಪಾದೋದಕ ಪ್ರಸಾದವ ಕೊಡುವನೊಬ್ಬ ಜಂಗಮದ್ರೋಹಿ ನೋಡ !
ಗುಹೇಶ್ವರಲಿಂಗವೆ ! ॥೪೫೪॥

೧೧೪೯

ಕ್ರಿಯಾಮಥನವಿಲ್ಲದೆ ಕಾಣಬಂದುದೆ ಇಕ್ಷುವಿನೊಳಗಣ ಮಧುರ ?
ಕ್ರಿಯಾಮಥನವಿಲ್ಲದೆ ಕಾಣಬಂದುದೆ ತಿಲದೊಳಗಣ ತೈಲ ?
ಕ್ರಿಯಾಮಥನವಿಲ್ಲದೆ ಕಾಣಬಂದುದೆ ಕ್ಷೀರದೊಳಗಣ ಘೃತ ?
ಕ್ರಿಯಾಮಥನವಿಲ್ಲದೆ ಕಾಣಬಂದುದೆ ಕಾಷ್ಠದೊಳಗಣ ಅಗ್ನಿ ?
ಇದು ಕಾರಣ.
ನಮ್ಮ ಗುಹೇಶ್ವರಲಿಂಗವ ತನ್ನೊಳರಿದೆನೆಂಬ ಮಹಂತಂಗೆ
ಸತ್‌ಕ್ರಿಯಾಚರಣೆಯೆ ಸಾಧನ ಕಾಣಿಭೋ. ॥೪೫೫॥

೧೧೫೦

ಕ್ಷೀರಕ್ಕೆ ತವರಾಜವ ಹೊಯ್ದಲ್ಲಿ. ಬೇರೆ ಲೇಸು ಕಷ್ಟವನರಸುವರೆ ?
ಅಂಗಕ್ಕೆ ತಿಮಿರವಾದಲ್ಲಿ ಅಂಗುಲ ಮುಟ್ಟಿ ತಿಮಿರದ ಅಂಗವ ಕೆಡಿಸಿದಡೆ.
ಅಂಗಕ್ಕೆ ಮಿಥ್ಯವುಂಟೆ ?

ಎನ್ನಂಗವು ತಾನಾದ ಕಾರಣ, 'ನೀನು' ಎಂಬ ನಾಮ ಬೇರಿಲ್ಲ
ಗುಹೇಶ್ವರಲಿಂಗವು ನೀನಾದ ಕಾರಣ. ॥೪೫೬॥

೧೧೫೧

ಕ್ಷೀರಸಾಗರದೊಳಗಿರ್ದ ಹಂಸೆಗೆ ಹಾಲ ಬಯಸಲುಂಟೆ ?
ಪುಷ್ಪದೊಳಗಿರ್ದ ತುಂಬಿಗೆ ಪರಿಮಳವನರಸಲುಂಟೆ ?
ತಾವು ಲಿಂಗದೊಳಗಿರ್ದು,
ಬೇರೆ ಇತರ ಕಾಮ್ಯಾರ್ಥದೊಳಗಿರ್ಪ
ಭ್ರಾಂತರನೇನೆಂಬೆನಯ್ಯಾ ಗುಹೇಶ್ವರಾ. ॥೪೫೭॥

೧೧೫೨

ಕ್ಷೀರಸಾಗರದೊಳಗಿರ್ದು ಆಕಳ ಚಿಂತೆಯೇಕೆ ?
ಮೇರುಮಂದಿರದೊಳಗಿರ್ದು ಜರಗ ತೊಳೆವ ಚಿಂತೆಯೇಕೆ ?
ಶ್ರೀಗುರುವಿನೊಳಗಿರ್ದು ತತ್ವವಿದ್ಯೆಯ ಚಿಂತೆಯೇಕೆ ?
ಪ್ರಸಾದದೊಳಗಿರ್ದು ಮುಕ್ತಿಯ ಚಿಂತೆಯೇಕೆ ?
ಕರಸ್ಥಲಕೆ ಲಿಂಗ ಬಂದ ಬಳಿಕ
ಇನ್ನಾವ ಚಿಂತೆ ಹೇಳಾ, ಗುಹೇಶ್ವರಾ. ॥೪೫೮॥

೧೧೫೩

ಖಂಡಿತವಿಲ್ಲಾಗಿ ಸರ್ವಾಂಗವೆಲ್ಲವೂ ನಾಸಿಕವಾಯಿತ್ತು.
ತಾನಲ್ಲದೆ ಅನ್ಯ ವಾಸನೆ ಇಲ್ಲವಾಗಿ.
ಅಲ್ಲಿಯೆ ಮಹತ್ತಪ್ಪ ಪೃಥ್ವಿಯಡಗಿತು.
ಖಂಡಿತವಿಲ್ಲಾಗಿ ಸರ್ವಾಂಗವೆಲ್ಲವೂ ಜಿಹ್ವೆಯಾಯಿತ್ತು.
ತಾನಲ್ಲದೆ ಅನ್ಯ ರುಚಿ ಇಲ್ಲವಾಗಿ.
ಅಲ್ಲಿಯೆ ಮಹತ್ತಪ್ಪ ಅಪ್ಪು ಅಡಗಿತ್ತು.
ಖಂಡಿತವಿಲ್ಲಾಗಿ ಸರ್ವಾಂಗವೆಲ್ಲವೂ ನೇತ್ರವಾಯಿತ್ತು.
ತಾನಲ್ಲದೆ ಅನ್ಯ ರೂಪಿಲ್ಲವಾಗಿ.
ಅಲ್ಲಿಯೆ ಮಹತ್ತಪ್ಪ ಅಗ್ನಿ ಅಡಗಿತ್ತು.
ಖಂಡಿತವಿಲ್ಲಾಗಿ ಸರ್ವಾಂಗವೆಲ್ಲವೂ ತ್ವಕ್ಕಾಯಿತ್ತು.
ತಾನಲ್ಲದೆ ಅನ್ಯ ಸೋಂಕಿಲ್ಲವಾಗಿ.
ಅಲ್ಲಿಯೆ ಮಹತ್ತಪ್ಪ ವಾಯು ಅಡಗಿತ್ತು.
ಖಂಡಿತವಿಲ್ಲಾಗಿ ಸರ್ವಾಂಗವೆಲ್ಲವೂ ಶ್ರೋತ್ರವಾಯಿತ್ತು.

ತಾನಲ್ಲದೆ ಅನ್ಯ ಶಬ್ದವಿಲ್ಲಾಗಿ,
ಅಲ್ಲಿಯೆ ಮಹತ್ತಪ್ಪ ಆಕಾಶವಡಗಿತ್ತು.
ಇಂತು ಪಂಚಭೂತಂಗಳಡಗಿದಡೆ,
ಪಂಚಬ್ರಹ್ಮಮಯವಾಯಿತ್ತು.
ಅದರೊಳಗೆ ಜಗತ್ತಡಗಿದ ಭೇದವದೆ.
ಪಂಚವರ್ಣಾತೀತವಾಗಿ ಮಹತ್ತನೊಳಕೊಂಡ
ಶರಣನ ಭೇದವನು ಏನೆಂದುಪಮಿಸುವೆನಯ್ಯಾ ಗುಹೇಶ್ವರಾ. ||೪೫೯||

೧೧೩೪

ಗಂಗಾದೇವಿ ಮುಂಡೆಯಾದಳು,
ಗೌರೀದೇವಿ ಓಲೆಯ ಕಳೆದಳು.
ಚಂದ್ರಸೂರ್ಯರಿಬ್ಬರೂ ನೀರಿಳಿದರು.
ವಾಯುದೇವ ವಿಮಾನವ ಹೊತ್ತ,
ವಾಸುದೇವ ತಲೆಗೂಳ್ಳಿಯನಿರಿದ.
ಅಲ್ಲಿಂದತ್ತ ಗುಹೇಶ್ವರ ಸತ್ತನೆಂಬ ಸುದ್ದಿ ! ||೪೬೦||

೧೧೩೫

ಗಂಗೆಯ ತಡಿಯಲೊಂದು ಐವಾಗಿಲಪಟ್ಟಣದ ಕಾಲುವಳ್ಳಿಯಲ್ಲಿ
ಹುಟ್ಟಿ ಬೆಳೆದೆ ನಾನು.
ತರುವಕ್ಕಳ ಕೂಡಿ ನೀರಾಟವ ಹೊಕ್ಕು,
ಉಟ್ಟುವ ಹೋಗಾಡಿಹಳೆಂದು
ಬಾಯ ಬಾಯ ಕುಟ್ಟಿ,
ಬ್ರಹ್ಮ ಪಾಶವೆಂಬ ಕಿರಿಗೆಯನುಗಿದುಕೊಂಡಳು ನಮ್ಮವ್ವೆ.
ಇಂತಪ್ಪ ತಾಯಿತಂದೆಯರ ಕೂಡೆ ಮುನಿದು ಹೋಗಿ,
ಗುಹೇಶ್ವರನಲ್ಲಯ್ಯನ ಮೊರೆಹೊಕ್ಕೆ.
ಇನ್ನು ಮರಳಿ ಬಂದು ಆ ಕಿರಿಗೆಯನುಟ್ಟೆನಾದಡೆ
ನಿಮ್ಮಾಣೆ ನಿಮ್ಮ ಪ್ರಮಥರಾಣೆ. ||೪೬೧||

೧೧೩೬

ಗಗನಕ್ಕೆ ನಿಚ್ಚಣಿಕೆಯನಿಕ್ಕಿದವರುಂಟೆ ?
ವಾಯುವಿನ ಸ್ಥಳವನರಿದವರುಂಟೆ ?
ಅಂಬುಧಿಯ ಗುಣ್ಪವನಳೆದವರುಂಟೆ ?
ಲಿಂಗದ ಪ್ರಮಾಣ ಹೇಳಬಹುದೆ ?

ಚಂದ್ರಮಂಡಲ ತಾರಾಮಂಡಲ ಸೂರ್ಯಮಂಡಲ ಇತ್ತಿತ್ತಲಯ್ಯಾ !
ಪಂಚಮುಖವಾಗಿ, ನೊಸಲಕಣ್ಣು ಚತುರ್ಭುಜ ಅಣುಮಾತ್ರವೆ ?
ಒಬ್ಬ ಶರಣನಾಗಿ ಗುಹೇಶ್ವರನೆಂಬ ಘನನೆಲೆಯ ಬಲ್ಲಡೆ
ಅಲ್ಲಿಂದತ್ತ ಶರಣು ಶರಣು. ॥೪೬೧॥

೧೧೫೭

ಗಗನಪನವದ ಮೇಲೆ ಉದಯಮುಖದನುಭಾವ,
ಸದಮದದ ಗಜವ ನಿಲಿಸುವ ಮಾವತಿಗ ಬಂದ.
ಅಷ್ಟದಳಕಮಲದೊಳು ಸೃಷ್ಟಿಯಂಕುರ ಭಜನೆ;
ಮೆಟ್ಟಿ ನಿಂದಾತ ಪರಮಯೋಗಿಯಾಗದೆ ಮಾಣ !
ಬಯಲ ಬಣ್ಣವ ತುಂಬಿ, ನೆಳಲ ಶೃಂಗಾರವ ಮಾಡಿದ
ಗುಹೇಶ್ವರನ ಶರಣ ಚನ್ನಬಸವಣ್ಣಂಗೆ ಶರಣೆನುತಿರ್ದೆನು. ॥೪೬೨॥

೧೧೫೮

ಗತಿಗೆಟ್ಟೆ ಧೃತಿಗೆಟ್ಟೆ ಮತಿಗೆಟ್ಟೆ ನಾನಯ್ಯಾ.
ನಡೆವಡೆ ಶಕ್ತಿಯಿಲ್ಲ ನುಡಿವಡೆ ಜಿಹ್ವೆಯಿಲ್ಲ.
ಇದಿರಲೊಬ್ಬರ ಉಪಚಾರ ಸೇರದು ನೋಡಾ ಎಮಗೆ.
ಬಂದ ಬರವನರಿದು ನಿಂದ ನಿಲವನರಿದು ಕೂಡಬಲ್ಲ ಶರಣಂಗೆ.
ಬೇರೊಂದು ಏಕಾಂತವೆಂಬ ಸಂದೇಹ ಉಂಟೆ ?
ತೆರಹಿಲ್ಲದ ಘನವನೊಳಕೊಂಡ ಬಳಿಕ
ಬರಲೆಡೆಯುಂಟೆ ನಮ್ಮ ಗುಹೇಶ್ವರಲಿಂಗಕ್ಕೆ ? ॥೪೬೪॥

೧೧೫೯

ಗತಿವಿರಹಿತನೇನೆಂಬೆ, ಎಂತೆಂಬೆ ?
ಅಘಟಿತಘಟಿತ ಅಖಂಡಿತಮಹಿಮನನೇನೆಂಬೆನೇನೆಂಬೆ ?
ಆದಿಯಿಂದತ್ತತ್ತ ಗುಹೇಶ್ವರ !
ಅಲ್ಲಯ್ಯನ ಸುಳುಹು ಜಗಕ್ಕೆ ಪಾವನ. ॥೪೬೫॥

೧೧೬೦

ಗಿಡುವಿಲ್ಲದ ಪುಷ್ಪಕ್ಕೆ ಕುಸುಮವಿಲ್ಲದ ಪರಿಮಳವಿದ್ದಿತ್ತಯ್ಯಾ !
'ಕ್ಷಂ ಕ್ಷಂ' ಎನುತ್ತಿದ್ದಿತಯ್ಯಾ.

'ಹಂ ಹಂ' ಎನುತ್ತಿದ್ದಿತಯ್ಯಾ.
ಬಯಲುವಿಡಿದು ಹೋದಡೆ,
ಪಿಂಡಕ್ಕೆ ಹೆಣನ ಸುಡುವರಿಲ್ಲ ಗುಹೇಶ್ವರಾ ! ॥೪೬೬॥

೧೧೬೧

ಗಿರಿಗಳ ಗುಹೆಗಳ ಕಂದರದಲ್ಲಿ, ನೆಲಹೊಲನ ಮುಟ್ಟದೆ ಇಪ್ಪೆ ದೇವಾ !
ಮನಕ್ಕೆ ಅಗಮ್ಯ ಅಗೋಚರನಾಗಿ, ಅಲ್ಲಲ್ಲಿ ಎಲ್ಲೆಲ್ಲಿಯೂ ನೀನೆ ಇಪ್ಪೆಯಯ್ಯಾ !
ಗುಹೇಶ್ವರಾ ನಿಮ್ಮನು ಅಗಲಕ್ಕೆ ಹರಿವರಿದು ಕಂಡೆ ನಾನು. ॥೪೬೭॥

೧೧೬೨

ಗುದ ಲಿಂಗ ನಾಭಿಕಮಲದಿಂದ ಮೇಲೆ ಷಡಂಗುಲವನೊತ್ತಿದಡೆ
ಕಣ್ಣಿಲ್ಲದೆ ಕಾಣಬಹುದು ಲಿಂಗಪ್ರಕಾಶವ,
ಕಿವಿಯಿಲ್ಲದೆ ಕೇಳಬಹುದು ಮಹಾನಾದ ಸುನಾದವ
ಕಂಡು ಕೇಳಿದ ಬಳಿಕ ಮನ ನಂಬದಿದ್ದಡೆ
ಮಕ್ಕಳಾಟಿಕೆ ತಪ್ಪದು ಗುಹೇಶ್ವರಾ. ॥೪೬೮॥

೧೧೬೩

ಗುರುತತ್ವದಲ್ಲಿ ಹುಟ್ಟಿ, ಶಿವತತ್ವದಲ್ಲಿ ಬೆಳೆದು
ಪರತತ್ವದಲ್ಲಿ ಮಗ್ನವಾದ ಶರಣಂಗೆ
ಕಾಯವಿಡಿದಡೇನು ? ಕಾಯವಳಿದು ನಿರ್ವಯಲಾದಡೇನು ?
ಕಾಯಸಮಾಧಿ ಕರಣಸಮಾಧಿ ಭಾವಸಮಾಧಿಯಾದ ಬಳಿಕ,
ಗುಹೇಶ್ವರಲಿಂಗದಲ್ಲಿ ಬಯಲಭ್ರಮೆಯ ಕಳೆದು
ಸುಜ್ಞಾನಸಮಾಧಿಯನೆಯ್ದ ಬಲ್ಲಡೆ
ಅದೇ ನಿಜಸಮಾಧಿ ಕೇಳಾ ಸಿದ್ಧರಾಮಯ್ಯಾ. ॥೪೬೯॥

೧೧೬೪

ಗುರುವ ನೆನೆದೆಹೆನೆಂದು ನೆನೆಯುತ್ತಿದ್ದಡೆ
ನೆನೆವ ಮನವು ತಾನು ಗುರುವಾಯಿತು ನೋಡಾ.
ಆಹಾ ! ಮಹಾದೇವ,
ಇನ್ನಾವುದರಿಂದ ? ಆವುದನು ? ಏನೆಂದು ನೆನೆವೆ ?
ಮನವೆ ಗುರುವಾದ ಕಾರಣ,–
ಮನವೆ ಗುರುವಾಗಿ ನೆನಹಾಂಬುಗೊಂಡನು
ಗುಹೇಶ್ವರಲಿಂಗ ಚೋದ್ಯಚರಿತ್ರನು ! ॥೪೭೦॥

೧೧೬೫

ಗುರುವಿಂಗೂ ಶಿಷ್ಯಂಗೂ,–
ಆವುದು ದೂರ ? ಆವುದು ಸಾರೆ ? ಎಂಬುದನು, ಆರುಬಲ್ಲರು ?
ಗುರುವೆ ಶಿಷ್ಯನಾದ ತನ್ನ ವಿನೋದಕ್ಕೆ. ಶಿಷ್ಯನೆ ಗುರುವಾದ ತನ್ನ ವಿನೋದಕ್ಕೆ.
ಕರ್ಮವೆಂಬ ಕೌಟಿಲ್ಯ ಎಡೆವೊಕ್ಕ ಕಾರಣ, ಭಿನ್ನವಾಗಿ ಇದ್ದಿತ್ತೆಂದಡೆ,
ಅದು ನಿಶ್ಚಯವಹುದೆ ?
ಆದಿ ಅನಾದಿಯಿಂದತ್ತತ್ತ ಮುನ್ನಲಾದ
ಪರತತ್ವಮಂ ತಿಳಿದು ನೋಡಲು,
ನೀನೆ ಸ್ವಯಂ ಜ್ಯೋತಿಪ್ರಕಾಶನೆಂದರಿಯಲು,
ನಿನಗೆ ನೀನೆ ಗುರುವಲ್ಲದೆ ನಿನ್ನಿಂದಧಿಕವಪ್ಪ ಗುರುವುಂಟೆ ?
ಇದು ಕಾರಣ ಗುಹೇಶ್ವರಲಿಂಗವು ತಾನೆ ಎಂಬುದನು
ತನ್ನಿಂದ ತಾನೆ ಅರಿಯಬೇಕು ನೋಡಾ. ॥೪೭೧॥

೧೧೬೬

ಗುರುವಿಡಿದ ಅರಿವು ಅರಿವಲ್ಲ,
ಲಿಂಗವಿಡಿದ ಅರಿವು ಅರಿವಲ್ಲ.
ಇಲ್ಲದ ಗುರು ಇಲ್ಲದ ಲಿಂಗ !
ಕಲ್ಪಿತಕ್ಕೆ ಅರಿವಹುದೆ ?
ತನ್ನಿಂದ ತಾನರಿವುದೆ ಅರಿವು ಗುಹೇಶ್ವರಾ. ॥೪೭೨॥

೧೧೬೭

ಗುರುವಿದು ಲಿಂಗವಿದು ಜಂಗಮವಿದು ಎಂಬ ಭೇದವ
ಏಕವ ಮಾಡಿ ನಿನಗೆ ತೋರಿದವರಾರು ಹೇಳಾ ?
ಆದಿ ಅನಾದಿಯನು ಒಂದು ಮಾಡುವ,
ಭಾವ ನಿರ್ಭಾವವನು ಅರುಹಿದವರಾರು ಹೇಳಾ ?
ದೀಕ್ಷೆ ಶಿಕ್ಷೆ ಸ್ವಾನುಭಾವದ ಪರಿಯ ತೋರಿ
ನಿಜಪದದಲ್ಲಿ ನಿಲಿಸಿದವರಾದು ಹೇಳಾ ?
ಗುಹೇಶ್ವರಲಿಂಗದಲ್ಲಿ
ನಿನ್ನ ಆಯತವ ಹೇಳಾ ಮಡಿವಾಳ ಮಾಚಯ್ಯಾ ? ॥೪೭೩॥

೧೧೬೮

ಗುರುವಿನ ಪರಿ ವಿಪರೀತವಾಯಿತ್ತಯ್ಯಾ.
ಭ್ರಮರ–ಕೀಟ ನ್ಯಾಯದಂತಾಯಿತ್ತು.

ಗುರು ತನ್ನ ನೆನೆವನ್ನಬರ ಎನ್ನನಾ ಗುರುವ ಮಾಡಿದನು.
ಇನ್ನು ಶಿಷ್ಯನಾಗಿ ಶ್ರೀಗುರುವ ಪೂಜಿಸುವರಾರು
ಹೇಳಾ ಗುಹೇಶ್ವರಾ ? ॥ ೪೭೪॥

೧೧೭೯

ಗುರುವಿನ ಪ್ರಾಣ ಲಿಂಗದಲ್ಲಿ ಲೀಯವಾದ ಬಳಿಕ
ಆ ಲಿಂಗವೆನ್ನ ಕರಸ್ಥಲಕ್ಕೆ ಬಂದಿತ್ತು ನೋಡಾ.
ಇದ್ದಾನೆ ನೋಡಾ ಎನ್ನ ಗುರು ಅನಿಮಿಷನು ಎನ್ನ ಕರಸ್ಥಲದಲ್ಲಿ.
ಇದ್ದಾನೆ ನೋಡಾ ಎನ್ನ ಗುರು ಅನಿಮಿಷನು ಎನ್ನ ಜ್ಞಾನದೊಳಗೆ.
ಇದ್ದಾನೆ ನೋಡಾ ಎನ್ನ ಗುರುವಿನ ಗುರು ಪರಮಗುರು
ಬಸವಣ್ಣ ಎನ್ನ ಕಂಗಳ ಮುಂದೆ !
ಗುಹೇಶ್ವರ ಸಾಕ್ಷಿಯಾಗಿ,
ಎನ್ನ ಮೇಲೆ ದ್ರೋಹವಿಲ್ಲ ಕಾಣಾ ಚನ್ನಬಸವಣ್ಣಾ ! ॥ ೪೭೫॥

೧೧೮೦

ಗುರುವಿನಿಂದಾದ ಕಾಯವ ಬೆರಸಿ, ಗುರುವನರಿಯದಾದೆನಯ್ಯಾ.
ಲಿಂಗದಿಂದಾದ ಜೀವ ಬೆರಸಿ, ಲಿಂಗವನರಿಯದಾದೆನಯ್ಯಾ.
ಜಂಗಮದಿಂದಾದ ಮನವ ಬೆರಸಿ ಜಂಗಮವನರಿಯದಾದೆನಯ್ಯಾ.
ಈ ತ್ರಿವಿಧ ಭಕ್ತಿಯುಕ್ತಿಯ ಅರುಹಿಸಿ ಕೊಟ್ಟ
ಸಂಗನಬಸವಣ್ಣನ ಬೆರಸಿ—ನೀನು ನಾನು
ಬದುಕಿದೆವು ಕಾಣಾ ಗುಹೇಶ್ವರಾ. ॥ ೪೭೬॥

೧೧೮೧

ಗುರುವೆಂದರಿಯರು, ಹಿರಿಯರೆಂದರಿಯರು;
ದೇವರೆಂದರಿಯರು, ಭಕ್ತರೆಂದರಿಯರು.
ಲಿಂಗವೆಂದರಿಯರು, ಜಂಗಮವೆಂದರಿಯರು;
ಬಂದ ಬರವನರಿಯರು ನಿಂದ ನಿಲವನರಿಯರು.
ಶಿವಶರಣರ ನೋಯಿಸುವ ಪಾತಕರನೇನೆಂಬೆ ?
ಗುಹೇಶ್ವರಾ, ನಿಮ್ಮ ಮನ ನೊಂದ ನೋವು ಬರಿದೆ ಹೋಗದು. ॥ ೪೭೭॥

೧೧೭೨

ಗುರುವೆಂಬಾತ ಶಿಷ್ಯನಂತುವನರಿಯ,
ಶಿಷ್ಯನೆಂಬಾತ ಗುರುವನಂತುವನರಿಯ.
ಗುರುವಿನಲ್ಲಿ ಸಮವಿಲ್ಲ, ಶಿಷ್ಯನಲ್ಲಿ ಸಮವಿಲ್ಲ,
ಜಂಗಮ ಜಂಗಮದಲ್ಲಿ ಸಮವಿಲ್ಲ, ಭಕ್ತ ಭಕ್ತನಲ್ಲಿ ಸಮವಿಲ್ಲ.
ಇದು ಕಾರಣ ಕಲಿಯುಗದಲ್ಲಿ ಉಪದೇಶವ ಮಾಡುವ
ಕಾಳುಕುರಿಕೆಯ ಮಕ್ಕಳನೇನೆಂಬೆ ಗುಹೇಶ್ವರಾ. ॥೪೭೮॥

೧೧೭೩

ಗುರುವೊಂದೆ ಬಸಿರು, ಲಿಂಗ ಒಂದೆ ಬಸಿರು
ಜಂಗಮ ಒಂದೆ ಬಸಿರು ಪ್ರಸಾದ ಒಂದೆ ಬಸಿರು –
ಇದನಾರಯ್ಯಾ ಅಮಳೋಕ್ಯವ ಮಾಡಿ ತೋರಿದವರು ?
ಇದನಾರಯ್ಯಾ ಪ್ರಜ್ವಲಿತವ ಮಾಡಿ ಬೇರೆ ತೋರಿದವರು ?
ಪೂರ್ವಾಚಾರಿ ಭಕ್ತಿಭಾಂಡಾರಿ ಬಸವಣ್ಣಾ
ಎನಗೆ ನೀನು ಗುಹೇಶ್ವರಲಿಂಗವ ತೋರಿದೆಯಾಗಿ
ಲೋಕಾದಿಲೋಕವೆಲ್ಲವು ಎನಗೆ ಕಿಂಚಿತ್. ॥೪೭೯॥

೧೧೭೪

ಗುರು ಶಿಷ್ಯರಿಬ್ಬರ ಮಧ್ಯದಲ್ಲಿ ಒಂದು ಮಗು ಹುಟ್ಟಿತ್ತು ನೋಡಾ !
ಗುರುವಿಂಗೆ ಗುರುವಾದ ಪರಿಯೆಂತೊ ?
ಶಿಷ್ಯಂಗೆ ಶಿಷ್ಯನಾದ ಪರಿಯೆಂತೊ ?
ಆದಿಯ ಲಿಂಗವ ಸಾಧ್ಯವ ಮಾಡಿ ತೋರಿದ
ಗುಹೇಶ್ವರನ ಚನ್ನಬಸವಣ್ಣಂಗೆ
ಶರಣೆಂದು ಬದುಕಿದೆನು ಕಾಣಾ ಸಂಗನಬಸವಣ್ಣಾ. ॥೪೮೦॥

೧೧೭೫

ಗುರುಸ್ಥಲಭಕ್ತರ ಮೂಲ ಜ್ಞಾನಶಕ್ತಿಗಳಾರು ಗುರುಸ್ವರೂಪವಾದವು.
ಆ ಗುರುಸ್ವರೂಪವನುಳ್ಳ ಶಕ್ತಿಗಳಿಂದ,
ಪರಮಚೈತನ್ಯವೆಂಬ ಮಂಟಪ ಉದಯಿಸಿ
ಸಕಲಲೋಕಕ್ಕೆ ಆದಿಯಾಯಿತ್ತು.
ಆ ಮಂಟಪದ ಮೇಲೆ ನಾನು ಕುಳಿತು ಸಂತೋಷದಿಂದ
ಗುಹೇಶ್ವರಲಿಂಗವ ಕಣ್ಣು ತುಂಬಿ ನೋಡಿದ ನೋಟ
ಸಕಲಭಕ್ತರಿಗೆ ಕೂಟವಾಯಿತ್ತು ಕಾಣಾ ಸಂಗನಬಸವಣ್ಣಾ. ॥ ೪೮೧॥

೧೧೭೬

ಗುರುಸ್ಥಲ ಲಿಂಗಸ್ಥಲ ಜಂಗಮಸ್ಥಲ ಪ್ರಸಾದಸ್ಥಲವಡಗಿದ ಕರಸ್ಥಲ
ಇನ್ನಾರಿಗೆ ಸಾರಿತ್ತು ?
ನಿರ್ವಂಚಕತ್ವ ನಿತ್ಯನಿಜಸ್ಥಲವಾದ ಭಕ್ತಿಸ್ಥಲ
ಇನ್ನಾರಿಗೆ ಸಾರಿತ್ತು ಬಸವಣ್ಣಂಗಲ್ಲದೆ ?
ಗುಹೇಶ್ವರಾ ನಿಮ್ಮ ಶರಣ ಸಂಗನಬಸವಣ್ಣನ
ಮೊರೆಯ ಹೊಕ್ಕು ನಾನು ಬದುಕಿದೆನು. ॥ ೪೮೨॥

೧೧೭೭

ಗುರುಸ್ಥಲ ಲಿಂಗಸ್ಥಲ ಜಂಗಮಸ್ಥಲ ಪ್ರಸಾದಸ್ಥಲ–
ಬಸವಣ್ಣನ ಕರಸ್ಥಲದೊಳಗೆ ಅಡಗಿತ್ತಲ್ಲ !
ಇನ್ನಾರಿಗೆ ಭಕ್ತಿಸ್ಥಲ, ಇನ್ನಾರಿಗೆ ಸಾರುವುದೀ ಲಿಂಗಸ್ಥಲ ?
ಗುಹೇಶ್ವರಾ ಸಂಗನಬಸವಣ್ಣನ ಮೊರೆಹೊಕ್ಕು ಬದುಕಿದೆನು. ॥ ೪೮೩॥

೧೧೭೮

ಗುರುಸ್ವಾಯತವಾಯಿತ್ತು ಲಿಂಗಸ್ವಾಯತವಾಯಿತ್ತು,
ಜಂಗಮಸ್ವಾಯತವಾಯಿತ್ತು ಬಸವಣ್ಣನಿಂದಲೆಂದಡೆ–
ತನುವಿಲ್ಲದಿರಬೇಕು ಮನವಿಲ್ಲದಿರಬೇಕು ಧನವಿಲ್ಲದಿರಬೇಕು:
ಅರಿವರಿತು ಮರಹು ನಷ್ಟವಾಗಿರಬೇಕು.
ಗುಹೇಶ್ವರಲಿಂಗದಲ್ಲಿ.
ನಿರ್ಲೇಪಿಯಾದಲ್ಲದೆ ಇಲ್ಲ ಕಾಣಾ ಮಡಿವಾಳ ಮಾಚಯ್ಯಾ. ॥ ೪೮೪॥

೧೧೭೯

ಘಟಪಟದ ಭಿತ್ತಿಯಂತೆ ಭಿನ್ನವೆಂಬ ಹಾಂಗೆ ಇಹುದು.
ತಿಳಿದು ನೋಡಿದಡೆ ಭಿನ್ನವುಂಟೆ ?
ಘಟದೊಳಗಣ ಬಯಲು. ಪಟದೊಳಗಣ ನೂಲು:
ಭಿತ್ತಿಯ ಮೃತ್ತಿಕೆಯಂತೆ ಒಂದಲ್ಲದೆ ಎರಡಿಲ್ಲ.
ದೇಹಿಗಳೊಳಗೆ ಗುಹೇಶ್ವರನಲ್ಲದೆ ಮತ್ತಾರೂ ಇಲ್ಲ. ॥ ೪೮೫॥

೧೧೮೦

ಘನಚೈತನ್ಯಜಂಗಮದ ಕಾರಣಾಂಗವಾದಾತ ಗುರು.
ನಿಜಚೈತನ್ಯವನುಳ್ಳ ಜಂಗಮದ ಸೂಕ್ಷ್ಮಾಂಗವಾದಾತ ಗುರು.
ಸುಚೈತನ್ಯಜಂಗಮದ ಚರವಿಗ್ರಹವಾದಾತ ಗುರು.

ಭಕ್ತಾಚಾರವನುಳ್ಳ ಸ್ಥೂಲಾಂಗವಾದಾತ ಗುರು.
ಇಂತೀ ಘನಚೈತನ್ಯ ಜಂಗಮದ ಸ್ವರೂಪನಾದಾತ ಗುರು.
ಅಂತಪ್ಪ ಜಂಗಮದ ಸಂಬಂಧವಾದ ಶ್ರೀಗುರುವಿಂಗೆ,
ನಮೋ ನಮೋ ಎಂಬೆನು ಕಾಣಾ ಗುಹೇಶ್ವರಯ್ಯಾ. ॥ ೪೮೬॥

೧೧೮೧

ಘನವ ನೆನೆವ ಮನದಲ್ಲಿ ತನುವಿನಾಸೆ ಮುನ್ನಿಲ್ಲ,
ನೆನೆವ ಮನವನೊಳಕೊಂಡ ಘನವನೇನೆಂಬೆನಯ್ಯಾ !
ತನ್ನಲ್ಲಿ ತಾನೆಯಾಗಿತ್ತು !
ನೆನಹಳಿದ ನಿರಾಳವ ಕಂಡು ಬೆರಗಾದೆ !
ಅಂತು ಇಂತು ಎನಲಿಲ್ಲ.
ಚಿಂತೆಯಿಲ್ಲದ ಘನಗುಹೇಶ್ವರಯ್ಯನ ಬೆರಸಲಿಲ್ಲ. ॥ ೪೮೭॥

೧೧೮೨

ಘನವಪ್ಪ ಪರಿಯಾಣದಲ್ಲಿ ಒಂದನುವಿನ ಬೋನವನಳವಡಿಸಿ,
ಪರಿಪರಿಯ ಪದಾರ್ಥಂಗಳು ಬಗೆಬಗೆಯಿಂದ ಬರಲು,
ನೋಡದ ಮುನ್ನವೆ ರೂಪವರ್ಪಿತವಾಯಿತ್ತು.
ಮುಟ್ಟದ ಮುನ್ನವೆ ಸೋಂಕರ್ಪಿತವಾಯಿತ್ತು.
ರುಚಿಸದ ಮುನ್ನವೆ ಸುಖವರ್ಪಿತವಾಯಿತ್ತು.
ಅವಧಾರು ಅವಧಾರು ಲಿಂಗವೆ,
ನಿನ್ನ ಮನಕ್ಕೆ ಬಂದ ಪದಾರ್ಥವ ನಿನ್ನ ಘನಕ್ಕೆ ನೀನರ್ಪಿಸಿದಡೆ
ಎನ್ನ ಮನಕ್ಕೆ ಬಂದ ಪದಾರ್ಥವ ನಾ ನಿನಗರ್ಪಿಸುವೆನು.
ಗುಹೇಶ್ವರಾ ನಿನಗೆ ಭರಿತ ಬೋನವನಳವಡಿಸಿ ನೀಡಬಲ್ಲವನಾಗಿ
ಎನಗೂ ನಿನಗೂ ಸಂಗನಬಸವಣ್ಣನ ಪ್ರಸಾದ—
ಆರೋಗಿಸು ದೇವಾ. ॥ ೪೮೮॥

೧೧೮೩

ಘುಟಿಕಾಸಿದ್ಧರ ಘುಟಿಕೆಯುರುಳಿತ್ತು
ಯಂತ್ರಿಗಳ ಯಂತ್ರ ಎದ್ದು ಹೋಯಿತ್ತು
ಮಂತ್ರಿಗಳ ಮಂತ್ರ ಮರೆತುಹೋಯಿತ್ತು
ಔಷಧಿಗರ ಔಷಧವನಾರಡಿಗೊಂಡಿತ್ತು
ಸರ್ವವಿದ್ಯಾಮುಖದ ಜ್ಯೋತಿ ಸಂದಿತ್ತು

ಈ ವಿಷಯದ ಲಹರಿಯಲ್ಲಿ ಮೂರುಲೋಕದವರೆಲ್ಲರು
ಮೂರ್ಛಿತರಾದರು ಕಾಣಾ ಗುಹೇಶ್ವರ. ॥೪೮೯॥

೧೧೮೪

ಚಂದ್ರಮನ ಕಾಂಬಡೆ ಆ ಚಂದ್ರನಿಂದೊದಗಿದ ಬೆಳಗೆ ಮುಖ್ಯ.
ಸೂರ್ಯನ ಕಾಂಬಡೆ ಆ ಸೂರ್ಯನಿಂದೊದಗಿದ ಬೆಳಗೆ ಮುಖ್ಯ.
ಜ್ಯೋತಿಯ ಕಾಂಬಡೆ ಆ ಜ್ಯೋತಿಯಿಂದೊದಗಿದ ಬೆಳಗೆ ಮುಖ್ಯ.
ರತ್ನವ ಕಾಂಬಡೆ ಆ ರತ್ನದಿಂದೊದಗಿದ ಬೆಳಗೆ ಮುಖ್ಯ.
ನಮ್ಮ ಗುಹೇಶ್ವರಲಿಂಗವ ಕಾಂಬಡೆ
ಆ ಮಹಾವಸ್ತುವಿನ ಪರಮ ಪ್ರಕಾಶದಿಂದೊದಗಿದ
ಭಸಿತವೇ ಮುಖ್ಯ ಕಾಣಿರಣ್ಣಾ. ॥೪೯೦॥

೧೧೮೫

ಚಿತ್ತದ ಸ್ನೇಹವ ಸಜ್ಜನಕ್ಕರ್ಪಿತವ ಮಾಡೆ;
ನಟ್ಟಿದ್ದ ಬೇಟಕ್ಕೆ ತಾಗು–ತಡೆಯುಂಟೆ ಎಲೆ ಮರುಳೆ ?
ಆತುರದಲ್ಲಿ ಕಳವಳಿಸಿ, ವ್ಯಾಕುಳದಲ್ಲಿ ಡಾವರಿಸುತ್ತಿಪ್ಪುದೀ ಮನವು.
ಈ ಮನವು ಚಿಹ್ನೆದೋರದ ಘನಕ್ಕೆ ಬೆಂಬತ್ತಿ ಬಿಡದಿರಬಲ್ಲಡೆ,
ತನ್ಮೂರ್ತಿ ತನ್ನಲ್ಲಿ ಗುಹೇಶ್ವರಲಿಂಗವು ! ॥೪೯೧॥

೧೧೮೬

ಚಿತ್ತ ಶುದ್ಧವಿಲ್ಲದವರಲ್ಲಿ ಮನ ಸಂಚಲ ನಿಲ್ಲದು.
ಮನ ಸಂಚಲ ನಿಲ್ಲದವರಲ್ಲಿ ಶಿವಧ್ಯಾನ ಕರಿಗೊಳ್ಳದು.
ಶಿವಧ್ಯಾನ ಕರಿಗೊಳ್ಳದವನ ಮಾತು ಸಟೆ.
ಗುಹೇಶ್ವರಲಿಂಗವನರಿಯದ ಭ್ರಾಂತಿಯೋಗಿಗಳ ಮನ
ಬೇತಾಳನಂತೆ ಕಾಡುವುದು. ॥೪೯೨॥

೧೧೮೭

ಚಿತ್ತುವೆಂಬ ಬಿತ್ತು ಬಲಿದು ಎರಡಾದಲ್ಲಿ,
ಲಿಂಗವೆಂಬ ಕಳೆ ಅಂಕುರಿಸಿ ಮೂರ್ತಿಯಾಯಿತ್ತು.
ಆ ಮೂರ್ತಿಯ ಘನತೆಯ ಏನೆಂದೂ ಉಪಮಿಸಬಾರದು !
ನೋಡಿದಡೆ ಮೂರ್ತಿ ಹಿಡಿದಡೆ ಬಯಲು !
ಆ ಮೂರ್ತಿಯೊಳಗದೆ ಈರೇಳು ಲೋಕದ ಪ್ರಾಣಕಳೆ.
ಆ ಕಳೆಯ ಬೆಳಗು ತಾನೆ ನಮ್ಮ ಗುಹೇಶ್ವರಲಿಂಗದಲ್ಲಿ
ಲೀಲಾಮೂಲದ ಪ್ರಥಮ ಭಿತ್ತಿ. ॥೪೯೩॥

೧೧೮೮

ಚಿನ್ನವನೊರೆಯುಬಹುದಲ್ಲದೆ ಬಣ್ಣವನೊರೆಯುಬಹುದೆ ?
ಹೂವ ಮುಡಿಯಬಹುದಲ್ಲದೆ ಗಂಧವ ಮುಡಿಯಬಹುದೆ ?
ಕರ್ಮವ ಮಾಡಬಹುದಲ್ಲದೆ ವಸ್ತುವನರಿಯಬಹುದೆ ?
ಗುಹೇಶ್ವರನೆನಬಹುದಲ್ಲದೆ,
ಲಿಂಗವು ತಾನಾಗಬಾರದು ಸಿದ್ಧರಾಮಯ್ಯಾ. ॥೯೪॥

೧೧೮೯

ಚೌದಂತ ಮದಕರಿಯೊಳಡಗಿತ್ತು.
ಬೆಳಗಿನ ಬಳಗದ ನವಪಂಜರವೊ !
ಮದಾಳಿಯ ಸುಳುಹಿನ ಸೂಕ್ಷ್ಮಂಗಲ್ಲದೆ.
ಭಾವ ಪರಿಮಳವ ಭೇದಿಸಬಾರದು.
ಅಳಿ ರತುನವ ನುಂಗಿದ ಪರಿಯೆಂತೊ ?
ಸಾಧ್ಯವಾಯಿತ್ತು ಸುಖಸಂಭಾಷಣೆ
ಗುಹೇಶ್ವರಲಿಂಗದಲ್ಲಿ ಚನ್ನಬಸವಣ್ಣಂಗೆ. ॥೯೫॥

೧೧೯೦

ಜಂಗಮಕ್ಕೆ ಲಕ್ಷಣವಾವುದೆಂದಡೆ :
ಲಿಂಗರೂಪಾಗಿ ಪಾದಾರ್ಚನೆಯ ಮಾಡಿಸಿಕೊಳ್ಳಬೇಕು.
ಭಕ್ತಂಗೆ ಲಕ್ಷಣವಾವುದೆಂದಡೆ:
ಭೃತ್ಯರೂಪಾಗಿ ಪಾದಾರ್ಚನೆಯ ಮಾಡಬೇಕು.
ಜಂಗಮವು ಲಿಂಗರೂಪವಹ ವಿವರವೆಂತೆಂದಡೆ:
ಮಾತಿನಲ್ಲಿ ನಾನು ಲಿಂಗರೂಪೆಂದಡೆ ಹರಿಯದು
ತನು – ಮನ – ಧನತ್ರಯಂಗಳ ಹಿಡಿದೂ ಹಿಡಿಯದೆ
ಮಾಡಿಸಿಕೊಂಬುದೀಗ ಜಂಗಮಕ್ಕೆ ಲಕ್ಷಣ.
ಆ ನಿಲವಿಂಗೆ ಭವಂನಾಸ್ತಿ.
ಭಕ್ತನು ಭೃತ್ಯರೂಪವಹ ವಿವರವೆಂತೆಂದಡೆ:
ಮಾತಿನಲ್ಲಿ ನಾನು ಭೃತ್ಯರೂಪೆಂದಡೆ ಹರಿಯದು.
ತನು – ಮನ – ಧನತ್ರಯಂಗಳ ಜೀವನ ಗುಣಕ್ಕಿಕ್ಕದೆ
ಗುರುಲಿಂಗಜಂಗಮಕ್ಕೆ ಸಂದಳಿದು ದಾಸೋಹವ ಮಾಡುವುದೀಗ ಭಕ್ತಂಗೆ ಲಕ್ಷಣ.
ಆ ನಿಲವಿಂಗೆ ಭವಂನಾಸ್ತಿ.

ಇಂತೀ ಉಭಯಕುಳಸ್ಥಳದ ಸಂದಳಿದು
ಒಂದಾಗಿ ನಿಂದ ನಿಲವು ಗುಹೇಶ್ವರಲಿಂಗದಲ್ಲಿ ಐಕ್ಯವು ! ॥೪೯೬॥

೧೧೯೧

ಜಂಗಮ ಜಂಗಮವೆಂಬ ಭಂಗಿತರ ಮುಖವ ನೋಡಲಾಗದು.
ಅದೇನು ಕಾರಣವೆಂದಡೆ—ನಿರಾಳಜಂಗಮವನರಿಯದೆ ನಾನೆ ಜಂಗಮವೆಂಬರು.
॥ಗ್ರಂಥ॥ "ಜಕಾರಂ ಜನನಂ ನಾಸ್ತಿ ಗಕಾರಂ ಗಮನವರ್ಜಿತಂ ।
ಮಕಾರಂ ಮರಣಂ ನಾಸ್ತಿ ಏತದ್ಭವ್ಜೇಂಗಮಂ ॥—
ಎಂದುದಾಗಿ, ಇಂತಪ್ಪ ನಿರ್ದೇಹಿ ಜಂಗಮವ ಕರ-ಮನ-ಭಾವದಲ್ಲಿ ಆರಾಧಿಸಿ
ಜನನ ಮರಣಂಗಳ ಗೆಲಿದು ಕರ್ಪುರದ ಜ್ಯೋತಿಯಂತೆ ಇರಬಲ್ಲಡೆ
ಆ ಮಹಾತ್ಮನೆ ತ್ರೈಜಗದೊಡೆಯನೆಂಬೆ,
ಆ ಮಹಾತ್ಮನೆ ವಿಶ್ವಪರಿಪೂರ್ಣನೆಂಬೆನು ಗುಹೇಶ್ವರಾ. ॥೪೯೭॥

೧೧೯೨

ಜಂಗಮದಿಂಗಿತಾಕಾರವ ನೋಡಿ ಲಿಂಗವೆಂದರಿದ ಭಕ್ತರು
ಮನ ಮನ ಬೆರಸಿದಡೆ,
ಕೂರ್ಮದ ಶಿಶುವಿನ ಸ್ನೇಹದಂತೆ ಮುನ್ನವೆ ತೆರಹಿಲ್ಲದಿರಬೇಕು ನೋಡಾ.
ಬಂದ ಬರವನರಿಯದೆ ನಿಂದ ನಿಲವ ನೋಡದೆ
ಕೆಮ್ಮನೆ ಅಹಂಕಾರವ ಹೊತ್ತಿಪ್ಪವರ
ನಮ್ಮ ಗುಹೇಶ್ವರಲಿಂಗನು ಒಲ್ಲ ಕಾಣಾ. ॥೪೯೮॥

೧೧೯೩

ಜಂಗಮವೆ ಲಿಂಗವೆಂದು ನಂಬಿದ ಬಳಿಕ
ಸಂದೇಹವಿಲ್ಲದೆ ಇರಬೇಕು ನೋಡಾ.
ಸಂದುಸಂಶಯವಳಿದು ಸಯವಾದ ಭಕ್ತಿ,
ಹಿಮ್ಮೆಟ್ಟಿದಡೆ ಹೋಯಿತ್ತಲ್ಲಾ.
ಒಪ್ಪಚ್ಚಿ ಬಳಿಕ ಕಿಂಕಲನಾಗಿ, ಮತ್ತೊಪ್ಪಚ್ಚಿ ಬಳಿಕ ಅಹಂಕಾರಿಯಾದಡೆ
ಹೋಗ ನೂಕುವ ಕಾಣಾ ನಮ್ಮ ಗುಹೇಶ್ವರಲಿಂಗವು. ॥೪೯೯॥

೧೧೯೪

ಜಂಗಮವೆ ಲಿಂಗವೆಂದು ನಂಬಿದ ಭಕ್ತನ ಕಣ್ಣ ಮುಂದೆ
[ಜಂಗಮ] ನಿಂದು ಹೋದಡೆ.

ಹಿಂದೆ ಮಾಡಿದ ಭಕ್ತಿಯೆಲ್ಲವೂ ನೀರಲ್ಲಿ ನೆನೆಯಿತ್ತು
ಮಂದಮತಿಯಾಗಿ ಕಂಡೂ ಕಡೆಗಣಿಸಿ
ಹೋಹವನು ಅಂಗವಿಕಾರಿ ನೋಡಾ.
ಮುಂದುವರಿದು ಅವನ ಮನೆಯ ಹೊಗುವ
ಜಂಗಮಕ್ಕೆ ಭವ ಹಿಂಗದು.
ನಮ್ಮ ಗುಹೇಶ್ವರಲಿಂಗವು
ಅರಿದು ಬರುದೊರೆವೋದವರ ಒಲ್ಲನು ಹೋಗಾ ಮರುಳೆ. ॥೫೦೦॥

೧೧೯೫

ಜಂಗಮವೆ ಹೊರಗಿರಲು ಲಿಂಗಾರ್ಚನೆ ಏವುದಯ್ಯಾ ?
ಪ್ರಾಣನ ಹೊರಗಿರಿಸಿ ಎಡೆಯಾಡುವ ದೇಹವುಂಟೆ ?
ಶರಣರು ಬಂದು ಬಾಗಿಲಲ್ಲಿ ನಿಂದಿರಲು
ತನ್ನ ತಾ ಮರೆದಿಪ್ಪವರ ಕಂಡಡೆ
ನಮ್ಮ ಗುಹೇಶ್ವರಲಿಂಗ ಒಡೆಯ ಹಾಯ್ಕದೆ ಮಾಣ್ಬನೆ ? ॥೫೦೧॥

೧೧೯೬

'ಜಗತ್‌ಸ್ವಯಂಭು' ಎಂಬ ಗುಹೇಶ್ವರನ
ಕರಸ್ಥಲದಲ್ಲಿ ಹಿಡಿದಾಡುತ್ತಿರ್ದಡೆ
ಆದಿಲಿಂಗವೆಂದು ಬಗೆಯದು ಲೋಕವೆಲ್ಲ.
ಗುಹೇಶ್ವರಾ–ನಿಮ್ಮ ಶರಣ ಬಸವಣ್ಣ,
ಅಚ್ಚಲಿಂಗವ ಹಿಡಿದ ಕಾರಣ.
ಬರಿಯ ಲಿಂಗದ ಮಸ್ತಕವಾಯಿತ್ತು ತ್ರಿಜಗದೊಳಗೆ ! ॥೫೦೨॥

೧೧೯೭

ಜಗತ್ತಿನ ಹೊಲೆಯನೆಲ್ಲವನು ಉದಕ ಕೊಳುವುದು.
ಆ ಉದಕದ ಹೊಲೆಯ ಕಳೆದಲ್ಲದೆ
ಲಿಂಗಕ್ಕೆ ಮಜ್ಜನಕ್ಕೆರೆವ ಲಿಂಗದ್ರೋಹಿಗಳ ಮಾತಕೇಳಲಾಗದು.
ಮೇಘಬಿಂದುವಿನಿಂದಾದ ಉದಕ. ಸೂರ್ಯನ ಮುಖದಿಂದಾಗಿ ದ್ರವ್ಯ.
ಅಗ್ನಿಯ ಮುಖದಿಂದಾದ ಪಾಕ– ಇಂತಿವರ ಪೂರ್ವಾಶ್ರಯವ ಕಳೆದಲ್ಲದೆ
ಭಕ್ತ ಮಾಹೇಶ್ವರರೂ ಶೀಲಪರರೂ ಮೊದಲಾದ
ನಾನಾ ವ್ರತಿಗಳು ಲಿಂಗಕ್ಕೆ ಮಜ್ಜನವ ಮಾಡಲಾಗದು.

ಅರ್ಪಿಸಲಾಗದು, ಅದೆಂತೆಂದಡೆ:
ಉದಕದ ಪೂರ್ವಾಶ್ರಯವನು, ದ್ರವ್ಯದ ಪೂರ್ವಾಶ್ರಯವನು,
ಕಳೆದಲ್ಲದೆ ಲಿಂಗಕ್ಕೆ ಅರ್ಪಿಸಬಾರದು.
ಇಂತೀ ತ್ರಿವಿಧದ ಪೂರ್ವಾಶ್ರಯವ ಕಳೆವ ಪರಿಯೆಂತೆಂದಡೆ:
ಉದಕದ ಪೂರ್ವಾಶ್ರಯವ ಮಂತ್ರಯುಕ್ತವಾಗಿ
ಜಂಗಮದ ಪಾದೋದಕದಿಂದ ಕಳೆದು
ಪಾಕಪ್ರಯತ್ನವ ಮಾಡುವುದು.
ದ್ರವ್ಯದ ಪೂರ್ವಾಶ್ರಯ ಜಂಗಮದ ಹಸ್ತ ಪರುಷದಿಂದ ಹೋದುದಾಗಿ
ಅಗ್ನಿಯಲಾದ ಪಾಕದ ಪೂರ್ವಾಶ್ರಯವು
ಜಂಗಮದ ಪ್ರಸಾದದಿಂದ ಹೋಯಿತ್ತು.
ಈ ಶಿವನ ವಾಕ್ಯಗಳನರಿದು, ಮತ್ತೆ
ಜಂಗಮದ ಪಾದೋದಕದಿಂದ ಪಾಕಪ್ರಯತ್ನವ ಮಾಡಲಾಗದು,
ಲಿಂಗಕ್ಕೆ ಮಜ್ಜನಕ್ಕೆರೆಯಲಾಗದೆಂಬ ಶೈವ ಬೌದ್ಧ
ಚಾರ್ವಾಕ ಚಾಂಡಾಲ ಶಿವದ್ರೋಹಿಯ ಮಾತಕೇಳಿ,
ಬಿಟ್ಟನಾದರೆ,– ಅವ ವ್ರತಭ್ರಷ್ಟ ಅವನ ಮುಖವ ನೋಡಲಾಗದು.
ಸಾಕ್ಷಿ: "ಸರ್ವಾಚಾರಪರಿಭ್ರಷ್ಟಃ ಶಿವಾಚಾರೇಣ ಶುಧ್ಯತಿ ।
ಶಿವಾಚಾರ ಪರಿಭ್ರಷ್ಟಃ ರೌರವಂ ನರಕಂ ವ್ರಜೇತ್"–
ಇಂತೆಂದುದಾಗಿ, ಸಮಸ್ತವಾದ ವ್ರತಂಗಳಲ್ಲಿ ಭ್ರಷ್ಟರಾದವರ
ಶಿವಾಚಾರದಲ್ಲಿ ಶುದ್ಧನ ಮಾಡಬಹುದು,
ಶಿವಾಚಾರದಲ್ಲಿ ಭ್ರಷ್ಟರಾದವರಿಗೆ ರೌರವ ನರಕ ತಪ್ಪದು.
ಅವಗೆ ಪ್ರಾಯಶ್ಚಿತ್ತವಿಲ್ಲಾಗಿ
ಅವನ ಮುಖವ ನೋಡಲಾಗದು, ಮತ್ತಂ
"ವ್ರತಭ್ರಷ್ಟಮುಖಂ ದೃಷ್ಟ್ವಾ ಶ್ವಾನಸೂಕರವಾಯಸಂ ।
ಅಶುದ್ಧಸ್ಯ ತಥಾದೃಷ್ಟಂ ದೂರತಃ ಪರಿವರ್ಜಯೇತ್"– ಇಂತೆಂದುದಾಗಿ,
ವ್ರತಶೀಲಗಳಲ್ಲಿ ನಿರುತನಾದ ಶಿವಶರಣನು ಪಥದಲ್ಲಿ ಆಚಾರಭ್ರಷ್ಟನ ಕಂಡಡೆ
ಮುಖವ ನೋಡಿದಡೆ ನಾಯ ಕಂಡಂತೆ ಸೂತಕನ ಕಂಡಂತೆ ಕಾಗೆಯ ಕಂಡಂತೆ
ಹೇಸಿಗೆಯ ಕಂಡಂತೆ ತೊಲಗುವುದು.
ಆ ವ್ರತವ ಬಿಡಿಸಿದವನು, ಅವನ ಮಾತ ಕೇಳಿ ಬಿಟ್ಟವನು
ಇಬ್ಬರಿಗೂ ಗುರುಲಿಂಗಜಂಗಮ ಪಾದೋದಕ ಪ್ರಸಾದಕ್ಕೆ ಹೊರಗಾಗಿ
ಅನಂತಕಾಲ ನರಕವನೈದುವರು. ಆ ಪಾಪಿಗಳ ಮುಖವ ನೋಡಲಾಗದು,
ನುಡಿಸಲಾಗದು ವ್ರತನಿಷ್ಠೆಯುಳ್ಳವರು ಕಾಣಾ ಗುಹೇಶ್ವರಾ. ॥೫೦೩॥

೧೧೯೮

ಜಗದ ಜನವ ಹಿಡಿದು ಉಪದೇಶವ ಮಾಡಿದ ಗುರುವಿಂಗೆ,
ಆ ಉಪದೇಶ ಕೊಟ್ಟುಕೊಂಡ ಮಾರಿಗೆ ಹೋಹುದಲ್ಲದೆ
ಅಲ್ಲಿ ನಿಜವಳವಡುವುದೆ ?
ತೆರನನರಿಯದ ಸಂಸಾರ ಜೀವಿಗಳು ಮಾಡಿದ ದೋಷ
ತಮ್ಮನುಂಗಿ, ಆ ಗುರುವಿಂಗೆ ಉಪಹತಿಯ ಮಾಡುವುದು ನೋಡಾ.
ಗುಹೇಶ್ವರಾ–ತಾನಿಟ್ಟ ಬೇತಾಳ ತನ್ನನೆ ತಿಂದಡೆ
ಬೇಕು ಬೇಡ ಎನಲುಂಟೆ ? ||೫೦೪||

೧೧೯೯

ಜಲ ಕೂರ್ಮ ಗಜ ಫಣಿಯ ಮೇಲೆ ಧರೆ ವಿಸ್ತರಿಸಿ ನಿಲ್ಲದಂದು,
ಗಗನವಿಲ್ಲದಂದು ಪವನನ ಸುಳುಹು ಇಲ್ಲದಂದು,
ಅಗ್ನಿಗೆ ಕಳೆ ಮೊಳೆದೋರದಂದು, ತರು ಗಿರಿ ತೃಣಕಾಷ್ಠಾದಿಗಳಿಲ್ಲದಂದು,
ಯುಗಜುಗ ಮಿಗಿಲೆನಿಸಿದ ಹದಿನಾಲ್ಕು ಭುವನ ನೆಲೆಗೊಳ್ಳದಂದು,
ನಿಜವನರಿದಿಹೆನೆಂಬ ತ್ರಿಜಗಾಧಿಪತಿಗಳಿಲ್ಲದಂದು–
ತೋರುವ ಬೀರುವ ಪರಿ ಇಲ್ಲದಂದು,
ಆ ಭಾವದಲ್ಲಿ ಭರಿತ ಅಗಮ್ಯ ಗುಹೇಶ್ವರ ನಿರಾಳವು ! ||೫೦೫||

೧೨೦೦

ಜಲದ ಸತ್ವ ಜಲಚರಾದಿಗಳಿಗಲ್ಲದೆ ಬಲುಹಿಲ್ಲ.
ವಾಗದ್ವೈತಿಗಳ ಅದ್ವೈತ, ಸ್ವಯವ ಮುಟ್ಟಬಲ್ಲುದೆ ?
ಗುಹೇಶ್ವರಲಿಂಗಕ್ಕೆ [ಅವರು] ದೂರ ಸಂಗನಬಸವಣ್ಣಾ. ||೫೦೬||

೧೨೦೧

ಜಲದೊಳಗೆ ಹುಟ್ಟಿದ ಹಲವು ಬಣ್ಣದ ವೃಕ್ಷ,
ಕೊಂಬಿಲ್ಲದೆ ಹೂವಾಯಿತ್ತು, ಇಂಬಿನಲ್ಲಿ ಫಲದೋರಿತ್ತು !
ಜಂಬೂದ್ವೀಪದ ಮುಗ್ಧೆಯ ಅಂಗೈಯ ಅರಳುದಲೆ
ಇಂದ್ರನ ವಾಹನವ ನುಂಗಿ,
ಬ್ರಹ್ಮರಂಧ್ರದೊಳಗೆ ಆಸನ ಪವನವ ದೃಢಸೂಸಿ
ಬೀಸರವೋಗದ ಶಿವಯೋಗ !

ಸಾಕ್ಷೀಭೂತಾತ್ಮದ ಮಾತು ಮಥನವ ನುಂಗಿ
ಜ್ಯೋತಿಯೊಳಗಣ ಕರ್ಪುರದ ಬೆಳಗಿನಂತಿದ್ದಿತ್ತು
ಗುಹೇಶ್ವರಲಿಂಗದಲ್ಲಿ ಯೋಗ ! ||೫೦೭||

೧೨೦೨

ಜಲವಿಲ್ಲದ ಕೆರೆ, ಫಲವಿಲ್ಲದ ಬನ,
ಭಕ್ತನಿಲ್ಲದ ಗ್ರಾಮ ಸುಡುಗಾಡಯ್ಯಾ,
ಅಲ್ಲಿ ಶಿವನಿಲ್ಲ,
ಪ್ರೇತಜಡಾರಣ್ಯದಲ್ಲಿ ಹೋಗಬಹುದೆ ಗುಹೇಶ್ವರಾ ? ||೫೦೮||

೧೨೦೩

ಜಾತಿಜಂಗಮ ಒಂದು ಕೋಟಾನುಕೋಟಿ,
ನೀತಿಜಂಗಮ ಒಂದು ಕೋಟಾನುಕೋಟಿ.
ಸಿದ್ಧಜಂಗಮ ಒಂದು ಕೋಟಾನುಕೋಟಿ.
ಜ್ಞಾನಜಂಗಮ ತ್ರೈಲೋಕ ದುರ್ಲಭ ಗುಹೇಶ್ವರಾ. ||೫೦೯||

೧೨೦೪

ಜಾತಿಭೇದಂಗಳನು ಅರಿವುದಯ್ಯಾ.
ಸಾಕ್ಷಾತ್ ಹಿಂದು ಮುಂದ ಹರಿವುದಯ್ಯಾ.
ಪ್ರೀತಿಯಿಂದ ಬೆಳಗು ಮತ್ತಪ್ಪುದಯ್ಯಾ.
ಆದಡೆ.–ಆತ ಗುಹೇಶ್ವರನೆಂದರಿವುದಯ್ಯಾ. ||೫೧೦||

೧೨೦೫

ಜ್ಞಾತೃವೆ ಅರಸುವುದು ಜ್ಞಾನವೆ ಅರಿವುದು.
ಜ್ಞೇಯವೆ ನಿಶ್ಚಯಿಸುವುದು.
ಈ ಜ್ಞಾತೃ ಜ್ಞಾನ ಜ್ಞೇಯವೆಂಬ ತ್ರಿವಿಧಸಾಧನದಿಂದ
ಲಿಂಗವನರಸಿ ಲಿಂಗವನರಿದು ಲಿಂಗವ ಬೆರಸಿ ಲಿಂಗವಾದ ಮತ್ತೆ,
ಜ್ಞಾತೃ ಜ್ಞಾನ ಜ್ಞೇಯವೆಂಬ ತ್ರಿವಿಧಭ್ರಾಂತಿಸೂತಕ ಹೋಯಿತ್ತು
ನಿಜವಾಯಿತ್ತು ಕಾಣಾ ಗುಹೇಶ್ವರಾ. ||೫೧೧||

೧೨೦೬

ಜ್ಞಾನದಿಂದ ನಿಮ್ಮನರಿದಿಹೆನೆಂದಡೆ:
ಅರಿವಿಂಗೆ ಬಂದಾಗಲೆ ಕುರುಹು.

ಕುರುಹಿಂಗೆ ಕೇಡುಂಟು:
ಜ್ಞಾನವೆಂಬುದೇನು ? ಮನೋಭೇದ !
ಇಂತಪ್ಪ ಜ್ಞಾನದ ಕೈಯಲ್ಲಿ,
ಅರುಹಿಸಿಕೊಂಡಡೆ ನೀ ದೇವನಲ್ಲ.
ಅರಿಯದಿದ್ದಡೆ ನಾ ಶರಣನಲ್ಲ.
ನೀ ದೇವ, ನಾ ಶರಣನೆಂತಾದೆ ಹೇಳಾ ಗುಹೇಶ್ವರಾ ? ॥ ೫೧೨॥

೧೨೦೭

ಜ್ಞಾನದುದಯವೇ ಭಕ್ತ.
ಜ್ಞಾನದ ಶೂನ್ಯವೇ ಐಕ್ಯ.
ಇಂತೀ ಜ್ಞಾನದಾದ್ಯಂತವನರಿವರಿವೆ ಸರ್ವಜ್ಞನಾದ ಈಶ್ವರ ನೋಡಾ.
ಅದೆಂತೆಂದಡೆ:
"ಚಿದೋದಯಶ್ಚ ಸದ್ಭಕ್ತೋ ಚಿತ್ಶೂನ್ಯಂಚೈಕ್ಯಮೇವ ಚ
ಉಭಯೋರೈಕ್ಯ ವಿಜ್ಞೇಯಾತ್ಸರ್ವಜ್ಞಮೀಶ್ವರಃ" (?)
ಎಂದುದಾಗಿ
ಇಂತೀ ಷಟ್ಸ್ಥಲದೊಳಗಾದ್ಯಂತವಡಗಿಹ ಭೇದವ
ನೀ ನಲ್ಲದನ್ಯರೆತ್ತ ಬಲ್ಲರು ಗುಹೇಶ್ವರಾ. ॥ ೫೧೩॥

೧೨೦೮

ಜ್ಞಾನೋದಯವಾಗಿ ಷಟ್‌ಸ್ಥಲದ ನಿರ್ಣಯವೆಂತುಟೆಂದು ವಿಚಾರಿಸೆ:
ಮೊದಲಲ್ಲಿ ಭಕ್ತಸ್ಥಲವೆಂತು ಹೇಳಿತ್ತು –
ಅಂತೆ ನಡೆದು ಪೂರೈಸಿ ಮಾಹೇಶ್ವರಸ್ಥಲಕ್ಕೆ ಬಂದು.
ಮಾಹೇಶ್ವರಸ್ಥಲವೆಂತು ಹೇಳಿತ್ತು –
ಅಂತೆ ನಡೆದು ಪೂರೈಸಿ ಪ್ರಸಾದಿಸ್ಥಲಕ್ಕೆ ಬಂದು.
ಪ್ರಸಾದಿಸ್ಥಲವೆಂತು ಹೇಳಿತ್ತು –
ಅಂತೆ ನಡೆದು ಪೂರೈಸಿ ಪ್ರಾಣಲಿಂಗಿಸ್ಥಲಕ್ಕೆ ಬಂದು.
ಪ್ರಾಣಲಿಂಗಿಸ್ಥಲವೆಂತು ಹೇಳಿತ್ತು –
ಅಂತೆ ನಡೆದು ಪೂರೈಸಿ ಶರಣಸ್ಥಲಕ್ಕೆ ಬಂದು.
ಶರಣಸ್ಥಲವೆಂತು ಹೇಳಿತ್ತು –
ಅಂತೆ ನಡೆದು ಪೂರೈಸಿ ಐಕ್ಯಸ್ಥಲಕ್ಕೆ ಬಂದು.
ಐಕ್ಯಸ್ಥಲವೆಂತು ಹೇಳಿತ್ತು –
ಅಂತೆ ನಡೆದು ಪೂರೈಸಿ ನಿರವಯಸ್ಥಲಕ್ಕೆ ಬಂದು
ನಿರಾಳಕ್ಕೆ ನಿರಾಳನಾದೆನಯ್ಯಾ ಗುಹೇಶ್ವರಾ. ॥ ೫೧೪॥

೧೨೯

ಜಿಹ್ವೆಯ ಮುಖದಿಂದುಂಡು ಗುಹ್ಯದ್ವಾರದಿಂ ಬಿಡುವನೆ ಯೋಗಿ ?
ಅಲ್ಲ, ನಿಲ್ಲು.
ಶುಕ್ಲ ಶೋಣಿತಮಲದೇಹಿಯಲ್ಲ –
ಇಬ್ಬಟ್ಟೆಯುಂ ಕಟ್ಟಿದ ಮಹಾಯೋಗಿ !
ಮೇಲಿಪ್ಪ ಕೈಲಾಸವ ಮರ್ತ್ಯಕ್ಕೆ ತಂದು ನಿಲಿಸಿದ,
ಸರಿಯಿಲ್ಲದ ಪ್ರತಿಯಿಲ್ಲದ ಗುಹೇಶ್ವರ
ಸಿದ್ಧರಾಮಯ್ಯದೇವರು ತಾನೆ. ॥೫೧೫॥

೧೩೦

ಜೀವಕ್ಕೆ ಜೀವವೇ ಆಧಾರ
ಜೀವತಪ್ಪಿಸಿ ಜೀವಿಸಬಾರದು.
"ಪೃಥ್ವೀಬೀಜಂ ತಥಾ ಮಾಂಸಂ ಅಪ್‌ದ್ರವ್ಯಂ ಸುರಾಮಯಂ ।
ಆತ್ಮಾ ಜೀವಸಮಾಯುಕ್ತಂ ಜೀವೋ ಜೀವೇನ ಭಕ್ಷಯೇತ್ ॥ ಎಂದುದಾಗಿ
ಅಹಿಂಸಾ ಪರಮೋಧರ್ಮವೆಂಬ ಶ್ರಾವಕರನು ಕಾಣೆ.
ಲಿಂಗಾರ್ಪಿತವಾದುದೆಲ್ಲ ಶುದ್ಧ; ಉಳಿದುದೆಲ್ಲ ಜೀವನ್ಮಯ ಕಾಣಾ,
ಗುಹೇಶ್ವರಾ. ॥೫೧೬॥

೧೩೧

ಡೊಂಕನ ಕೊಂಡು ಡೊಂಕನ ಕಾಡುವಡೆ
ನಮ್ಮ ಡೊಂಕನೆ ಸಾಲದೆ ?
ಕೆಮ್ಮುವನಾದಡೆ ನಮ್ಮವನೆ ಸಾಲದೆ ?
ಎಂಬ ಲೋಕದ ಗಾದೆಯ ಮಾತಿನಂತೆ;
ಈ ಡೊಂಕನ ಕೊಂಡು ಸಸಿನವ ಕೊಡಬಲ್ಲಡೆ
ಅವರ ಹಿರಯರೆಂಬೆ ಗುರುವೆಂಬೆ.
ಅವರಿಗೆ ನಮೋ ನಮೋ ಎಂಬೆ.
ಈ ಡೊಂಕನ ಕೊಂಡು ಸಸಿನವ ಕೊಡಲರಿಯದಿದ್ದಡೆ.
ಆ ಗುರುವಿಂಗೆ ಏಳನೆಯ ನರಕ.
ಭವಘೋರದಲ್ಲಿ ಓಲಾಡುತ್ತಿಹ.
ಇದು ಕಾರಣ,
ಡೊಂಕನ ಕೊಂಡು ಸಸಿನವ ಕೊಡಬಲ್ಲ
ಗುರು, ಅಪೂರ್ವ ಕಾಣಾ ಗುಹೇಶ್ವರಾ. ॥೫೧೭॥

೧೨೧೨

ತಂಗಾಳಿ ಪರಿಮಳದೊಡಗೂಡಿ ಸುಳಿವಂತೆ,
ಆ ಸುಳುಹಾಗಿ ಸುಳಿಯಬೇಕು.
ನಿಂದಡೆ ನೆಟ್ಟನೆ ಭಕ್ತನಾಗಿ ನಿಂದು
ಸಹಜ ಮಾಟವ ಮಾಡಬೇಕು.
ಸುಳಿದಡೆ ನೆಟ್ಟನೆ ಪರಮಜಂಗಮವಾಗಿ ಸುಳಿಯಬೇಕು.
ನಿಂದು ಭಕ್ತನಾಗಲರಿಯದ. ಸುಳಿದು ಜಂಗಮವಾಗಲರಿಯದ
ಉಭಯಭ್ರಷ್ಟರನೇನೆಂಬೆನಯ್ಯಾ ಗುಹೇಶ್ವರಾ. ॥೫೧೮॥

೧೨೧೩

ತತ್ತಿಯೊಳಗಣ ಹಕ್ಕಿಯ ಪ್ರಾಣವದೆತ್ತಣಿಂದ ತೋರಿತ್ತೊ ?
ಅದು ಮಾತನಾಡುವ ಬೆಡಗ ಜಡಜೀವಿಗಳೆತ್ತ ಬಲ್ಲರು ?
ಎತ್ತಿನ ಮರೆಯ ಬೇಟೆಕಾರನ
ಅಡವಿಯ ಮೃಗವೆತ್ತ ಬಲ್ಲವು ಗುಹೇಶ್ವರಾ ? ॥೫೧೯॥

೧೨೧೪

ತತ್ವವ ನುಡಿವ ಹಿರಿಯರೆಲ್ಲರು.
ತುತ್ತನಿಕ್ಕುವರ ಬಾಗಿಲಲ್ಲಿ, ಅಚ್ಚುಗಪಡುತ್ತಿದ್ದರು ನೋಡಾ,
ನಿತ್ಯಾನಿತ್ಯವ ಹೇಳುವ ಹಿರಿಯರು ತಮ್ಮ ಒಡಲ ಕಕ್ಕುಲತೆಗೆ ಹೋಗಿ,
ಭಕ್ತಿಯ ಹೊಲಬನರಿಯದ, ಜಡಜೀವಿ ಮಾನವರ ಇಚ್ಛೆಯ ನುಡಿದು,
ಹಲುಬುತ್ತಿಪ್ಪರು ನೋಡಾ !
ಕತ್ತೆಗೆ ಕರ್ಪೂರವ ಹೇರಿದಂತೆ,
ಅವರಿಗೆ ಇನ್ನೆತ್ತಣ ಮುಕ್ತಿಯೋ ಗುಹೇಶ್ವರಾ. ॥೫೨೦॥

೧೨೧೫

ತತ್ವಾತತ್ವಂಗಳಿಲ್ಲದಂದು, ಸಾಕ್ಷಿಸಭೆಗಳಿಲ್ಲದಂದು,
ಏನೇನಿಲ್ಲದಂದು, ಬಯಲು ಬಲಿವಂದು ಈ ಬಿಂದುವಾಯಿತ್ತು.
ಆ ಬಿಂದು ಅಕ್ಷರತ್ರಯ ಗದ್ದಿಗೆಯಲ್ಲಿ ಕುಳ್ಳಿರಲು ಲೋಕದುತುಪತಿಯಾಯಿತ್ತು.
ನಾದದ ಬಲದಿಂದ ಮೂರ್ತಿಯಾದನೊಬ್ಬ ಶರಣ.
ಆ ಶರಣನಿಂದಾದುದು ಪ್ರಕೃತಿ,
ಆ ಪ್ರಕೃತಿಯಿಂದಾಯಿತು ಲೋಕ ಲೌಕಿಕ
ಆ ಲೋಕ ಲೌಕಿಕವನತಿಗಳೆದು ನಿಜದಲ್ಲಿ ನಿವಾಸಿಯಾಗಿಪ್ಪ
ಗುಹೇಶ್ವರ, ನಿಮ್ಮ ಶರಣ ಸಂಗನಬಸವಣ್ಣ. ॥೫೨೧॥

೧೨೧೬

ತನಗುಳ್ಳ ನಿಧಾನ ತನಗಿಲ್ಲದಂತೆ,
ಬಂಧುಗಳೆಲ್ಲರ ನುಂಗಿ ಅಂಬುಧಿ ಬತ್ತಿತ್ತು.
ಅದುಭುತ ಸತ್ತಿತ್ತು: ರಣರಂಗವತ್ತಿತ್ತು.
ಇರುಳು ಮಾಣಿಕವ ನುಂಗಿ ಮರಣವಾದ ಬಳಿಕ
ಅಮೃತದ ಪುತ್ಥಳಿಯ ಹಾಲ ಕುಡಿಯ ಕರೆದಡೆ
ಗುಹೇಶ್ವರಲಿಂಗಕ್ಕೆ ಊಟವೆಂಬುದಿಲ್ಲ ನೋಡಾ ಸಂಗನಬಸವಣ್ಣಾ. ||೫೨೨||

೧೨೧೭

ತನ್ನ ಕಣ್ಣಿನಲ್ಲಿ ಕಾಣದಂತೆ ಇದ್ದಿತ್ತು ದರ್ಪಣದೊಳಗಣ ಬೆಳಗು.
ಬೆಳಗಿನೊಳಗಣ ಬೆಳಗು ಗುಹೇಶ್ವರನಿಪ್ಪೆಡೆಯ ತಿಳಿದು ನೋಡಯ್ಯಾ.
ಸಂಗನಬಸವಣ್ಣಾ. ||೫೨೩||

೧೨೧೮

ತನ್ನ ತಾನರಿತ ಬಳಿಕ ಅನ್ಯವಿಲ್ಲ.
ಕಾಬ ಮರಹು ನಷ್ಟವಾಯಿತ್ತು.
ಆ ಮರವೆ ನಷ್ಟವಾದ ಬಳಿಕ
ಅರಿವಿನ ಮರವೆಯ ನೆರೆ ಮರೆದ ಬಳಿಕ
ಅಲ್ಲಿ ನಿಶ್ಶಬ್ದವಾಯಿತ್ತು ಗುಹೇಶ್ವರಾ. ||೫೨೪||

೧೨೧೯

ತನ್ನ ತಾನರಿದಡೆ ನುಡಿಯೆಲ್ಲ ತತ್ವ ನೋಡಾ !
ತನ್ನ ತಾ ಮರೆದಡೆ ನುಡಿಯೆಲ್ಲ ಮಾಯೆ ನೋಡಾ !
ಅರಿದು ಮರೆದ ಶಿವಯೋಗಿಯ ಶಬ್ದವೆಲ್ಲವು
ಉಪದೇಶವಲ್ಲದೆ ಭಿನ್ನವುಂಟೆ ?
ನಿನ್ನ ಮನದ ಕಳವಳವ ತಿಳುಹಲೆಂದು ಮಾತನಾಡಿಸಿ ನೋಡಿದಡೆ,
ಎನ್ನ ಮನದೊಳಗೆ ಕಂದು ಕಲೆ ಎಂಬುದಿಲ್ಲ ನೋಡಾ !
ನಮ್ಮ ಗುಹೇಶ್ವರಲಿಂಗಕ್ಕೆ ನೀನು ಕರುಣದ ಶಿಶುವಾದ ಕಾರಣ
ಬಾಯ್ದೆಗೆದೆನಲ್ಲದೆ, ಭಿನ್ನವುಂಟೆ ಹೇಳಾ ಮರುಳೆ ? ||೫೨೫||

೧೨೨೦

ತನ್ನ ತಾನರಿದೆಹೆನೆಂದಡೆ ತನಗೆ ತಾನನ್ಯನೆ ?
ನಿಮ್ಮ ನಾನರಿದೆಹೆನೆಂದಡೆ ನಿಮ್ಮಿಂದಲಾನನ್ಯನೆ ?

ತನ್ನ ನಿಮ್ಮನರಿದೆಹೆನೆಂಬ ಅರಿವಿನ ಬೆನ್ನಲ್ಲಿಪ್ಪುದು
ತನ್ನ ತನ್ನಿಂದಿನ್ನೇತರಿಂದರಿವೆ ಹೇಳಾ ಗುಹೇಶ್ವರಾ. ॥೫೨॥

೧೨೨೧

ತನ್ನನರಿಯೆನೆಂಬುದು ಅಜ್ಞಾನ ನೋಡಾ.
ಅರಿಯದ ಅಜ್ಞಾನವ ಅಗಳೆದು
ಜ್ಞಾನವ ಕಾಣೆನೆಂಬುದು ವಿಪರೀತ ಭಾವ ನೋಡಾ !
ಎಲ್ಲವನು ತೋರುವ ಘನವನು ಎಲ್ಲಿಯೂ ಕಾಣಬಾರದು.
ಕಾಣಬಾರದ ನಿಜವ ತೋರಬಾರದು,
ತೋರಬಾರದ ನಿಜವ ತಿಳಿಯಬಾರದು,.
ಗುಹೇಶ್ವರಲಿಂಗದಲ್ಲಿ ಬಯಕೆಯುಳ್ಳನ್ನಕ್ಕ
ತವಕ ಎಡೆಗೊಂಡಿಪ್ಪ ಕಾರಣ
ತಿಳುಹಲಿಲ್ಲವೆಂಬುದ ನಿನ್ನ ನೀ ತಿಳಿದು ನೋಡಾ ಸಿದ್ಧರಾಮಯ್ಯಾ. ॥೫೭॥

೧೨೨೨

ತನ್ನಿಂದ ತನ್ನ ನೋಡಲು, ತನಗೆ ತಾ ಪ್ರತ್ಯಕ್ಷನಾಗೆ
ಆ ಪ್ರತ್ಯಕ್ಷವೆಂಬುದೆ ಭ್ರಾಂತು ನೋಡಾ !
ಅದೇನು ಕಾರಣವೆಂದಡೆ;
ತನಗೆ ತಾನು ಅನ್ಯವಲ್ಲಾಗಿ, ಎನಗೆ ಅನ್ಯವಿಲ್ಲ.
ಅನ್ಯ ನಾನಲ್ಲ ಎಂದು; 'ಬ್ರಹ್ಮವು ನಾನು' ಎಂಬೆಡೆ–
ಅದು ಅತಿಶಯದಿಂದ ಭ್ರಾಂತು–ಎಂಬುದನು ತಿಳಿದು ನೋಡಾ.
ಅದೇನು ಕಾರಣವೆಂದಡೆ:
'ಬ್ರಹ್ಮಕ್ಕೆ ನಾ ಬ್ರಹ್ಮ' ಎಂಬುದು ಘಟಿಸದಾಗಿ !
ಅತಿಶಯದ ಸುಖವಳಿದ ನಿರಂತರ ಸುಖವೆಂತುಟೆಂದಡೆ
ಗುರು ಮುಗ್ಧನಾದೆಡೆಯ ತಿಳಿಯಲು ನೋಡಲು
ಗುಹೇಶ್ವರಲಿಂಗದ ನಿಲವು ತಾನೆ. ॥೫೮॥

೧೨೨೩

ತನು ಉಂಟೆಂದಡೆ ಪಾಶಬದ್ಧ, ಮನ ಉಂಟೆಂದಡೆ ಭವಕ್ಕೆ ಬೀಜ.
ಅರಿವ ನುಡಿದು ಕೆಟ್ಟೆನೆಂದರೆ ಅದೇ ಅಜ್ಞಾನ.
ಭಾವದಲ್ಲಿ ಸಿಲುಕಿದೆನೆಂಬ ಮಾತು ಬಯಲ ಭ್ರಮೆ ನೋಡಾ.
ಒಮ್ಮೆ ಕಂಡೆ, ಒಮ್ಮೆ ಕಾಣೆ, ಒಮ್ಮೆ ಕೂಡಿದೆ, ಒಮ್ಮೆ ಅಗಲಿದೆ

ಎಂದಡೆ ಕರ್ಮ ಬೆಂಬತ್ತಿ ಬಿಡದು.
ನಿನ್ನೊಳಗೆ ನೀ ತಿಳಿದುನೋಡಲು ಭಿನ್ನವುಂಟೆ ?
ಗುಹೇಶ್ವರಲಿಂಗವನರಿವಡೆ ನೀನೆಂದೇ ತಿಳಿದು ನೋಡಾ ಮರುಳೆ ? ॥೫೨೯॥

೧೨೨೪

ತನುಗುಣನಾಸ್ತಿ ಮನಗುಣನಾಸ್ತಿ ಧನಗುಣನಾಸ್ತಿಯಾದಡೇನು ?
ಭಾವನಾಸ್ತಿಯಾಗಿರಬೇಕು.
ಭಾವನಾಸ್ತಿಯಾದಲ್ಲದೆ ಅರಿವು ನೆಲೆಗೊಳ್ಳದು.
ಅರಿವು ನೆಲೆಗೊಂಡಲ್ಲಿ ಕುರುಹಿಂಗೆ ಹೊರಗು
ಕುರುಹಳಿದು ಕೂಡುವ ಪರಮಸುಖವು,
ಗುಹೇಶ್ವರಲಿಂಗದಲ್ಲಿ ನಿನಗೆ ಸಾಧ್ಯವಾದ ಪರಿಯ ಹೇಳಾ
ಮಡಿವಾಳ ಮಾಚಯ್ಯಾ ? ॥೫೩೦॥

೧೨೨೫

ತನುಗುಣನಾಸ್ತಿಯಾಗಿ ಲಿಂಗಸಂಗಿಯಾದಳು.
ಮನಗುಣನಾಸ್ತಿಯಾಗಿ ಅರಿವುಸಂಗಿಯಾದಳು.
ಭಾವಗುಣನಾಸ್ತಿಯಾಗಿ ಮಹಾಪ್ರಭೆ ತಾನಾದಳು.
'ತಾನು' 'ಇದಿರು' ಎಂಬ ಎರಡಳಿದು
ನಮ್ಮ ಗುಹೇಶ್ವರಲಿಂಗದಲ್ಲಿ ಸ್ವಯಲಿಂಗವಾದ
ಮಹಾದೇವಿಯಕ್ಕಗಳ ನಿಲವಿಂಗೆ ಶರಣೆನುತಿರ್ದೆನು. ॥೫೩೧॥

೧೨೨೬

ತನು ದಾಸೋಹ, ಅವಯವಂಗಳೆಲ್ಲವು ಆಚಾರ,
ಮನ ಪ್ರಾಣವೆಂಬವೆಲ್ಲವು ಅರಿವಿನ ಮೂರ್ತಿ ನೋಡಾ.
ಒಳಗು ಹೊರಗು, ಹೊರಗು ಒಳಗು ಎಂಬುದನರಿಯದ
ಸತ್ಯ ಸದಾಚಾರಿ ನೀನು.
ನಿನ್ನಳವ ಅರಿಯಲು ಆನು ಎತರವನಯ್ಯಾ.
ಅಂತರಂಗದಲ್ಲಿ ಅರಿವು ಉಂಟಾದಡೇನು ?
ಎನ್ನ ಕಾಯದಲ್ಲಿ ಭಕ್ತಿ ಸ್ವಾಯತವಿಲ್ಲ, ಆಚಾರವೆಂಬುದು ಅತ್ತತ್ತಲಿಲ್ಲ.
ಸರ್ವಾಚಾರಸಂಪನ್ನ [ನೀನು], ನಿನ್ನಳವ ನಾನೆತ್ತ ಬಲ್ಲೆನಯ್ಯಾ ?
ಗುಹೇಶ್ವರ ಸಾಕ್ಷಿಯಾಗಿ,
ನಿಮ್ಮ ಮಹಾಮನೆಯ ಕಾವಲು ಬಂಟ ನಾನೆಂಬುದ
ನಿಮ್ಮ ಪ್ರಮಥರೆಲ್ಲಾ ಬಲ್ಲರು ಸಂಗನಬಸವಣ್ಣಾ. ॥೫೩೨॥

೧೨೨೭

ತನುವ ಗುರುವಿಂಗರ್ಪಿಸಿ, ಮನವ ಲಿಂಗಕ್ಕರ್ಪಿಸಿ,
ಭಾವವ ಜಂಗಮಕ್ಕರ್ಪಿಸಿ, ನಿಜವ ತೃಪ್ತಿಯಲರ್ಪಿಸಿ,
ಘನವ ಅರಿವಿಂಗೆ ಅರ್ಪಿಸಿ,
ಅರ್ಪಿತವೆ ಅನರ್ಪಿತವಾಗಿ, ಅನರ್ಪಿತವೆ ಅರ್ಪಿತವಾಗಿ
ಅರ್ಪಿತ ಅನರ್ಪಿತಗಳಳಿದು ನಿತ್ಯಪ್ರಸಾದಿಯಾಗಿ
ಪ್ರಸಾದದ ಹಾದಿಯನೆಲ್ಲರಿಗೆ ತೋರಿ
ಮಹಾಪ್ರಸಾದದ ಬೆಳವಿಗೆಯ ಮಾಡಿದನು–
ಗುಹೇಶ್ವರನ ಶರಣ ಚನ್ನಬಸವಣ್ಣನು. ॥೫೩೩॥

೧೨೨೮

ತನುವ ಗೆಲಲರಿಯದೆ, ಮನವ ಗೆಲಲರಿಯದೆ
ಧನವ ಗೆಲಲರಿಯದೆ, ಭ್ರಮೆಗೊಂಡಿತ್ತು ಲೋಕವೆಲ್ಲವು.
ತನುವ ದಾಸೋಹಕ್ಕೆ ಸವೆಸಿ, ಮನವ ಲಿಂಗಧ್ಯಾನದಲ್ಲಿ ಸವೆಸಿ
ಧನವ ಜಂಗಮದಲ್ಲಿ ಸವೆಸಿ ಗೆಲಬಲ್ಲಡೆ,
ಸಂಗನಬಸವಣ್ಣನಲ್ಲದೆ ಮತ್ತಾರನು ಕಾಣೆ.
ಗುಹೇಶ್ವರಾ–ನಿಮ್ಮ ಶರಣ ಸಂಗನಬಸವಣ್ಣಂಗೆ,
ನಮೋ ನಮೋ ಎನುತಿರ್ದೆನು. ॥೫೩೪॥

೧೨೨೯

ತನುವ ತೋಂಟವ ಮಾಡಿ ಮನವ ಗುದ್ದಲಿ ಮಾಡಿ
ಅಗೆದು ಕಳೆದೆನಯ್ಯಾ ಭ್ರಾಂತಿನ ಬೇರ
ಒಡೆದು ಸಂಸಾರದ ಹೆಂಟೆಯ ಬಗಿದು ಬಿತ್ತಿದೆನಯ್ಯಾ ಬ್ರಹ್ಮಬೀಜವ.
ಅಖಂಡಮಂಡಲವೆಂಬ ಭಾವಿ, ಪವನವೆ ರಾಟಾಳ
ಸುಷುಮ್ನನಾಳದಿಂದ ಉದಕವ ತಿದ್ದಿ
ಬಸವಗಳೈವರು ಹಸಗೆಡಿಸಿಹವೆಂದು
ಸಮತೆ ಸೈರಣೆಯೆಂಬ ಬೇಲಿಯನಿಕ್ಕಿ,
ಆವಾಗಳೂ ಈ ತೋಂಟದಲ್ಲಿ ಜಾಗರವಿದ್ದು
ಸಸಿಯ ಸಲಹಿದೆನು ಕಾಣಾ ಗುಹೇಶ್ವರಾ. ॥೫೩೫॥

೧೨೩೦

ತನುವರ್ಪಿತವೆಂದಡೆ ಗುರುದ್ರೋಹ.
ಮನವರ್ಪಿತವೆಂದಡೆ ಲಿಂಗದ್ರೋಹ.

ಧನವರ್ಜಿತವೆಂದಡೆ ಜಂಗಮದ್ರೋಹ–
ಇಂತೀ ತನುಮನಧನಗಳೆಂಬ ಅನಿತ್ಯವನು
ನಿತ್ಯಕ್ಕರ್ಪಿಸಿ ಭಕ್ತನಾದೆನೆಂದಡೆ, ಅದು ಅಜ್ಞಾನ ನೋಡಾ.
ಒಡೆಯರಿಗೆ ಉಂಡೆಯ ಮುರಿದಿಕ್ಕಿ
ನಾ ಭಕ್ತನೆಂಬ ಮಾತ ಸಮ್ಯಕ್ ಶರಣರು ಮೆಚ್ಚುವರೆ ?
ನಮ್ಮ ಗುಹೇಶ್ವರಲಿಂಗಕ್ಕೆ,
ನೀನು ಆವುದರಲ್ಲಿ ಏನನರ್ಪಿಸಿ ಭಕ್ತನಾದೆ ಹೇಳಾ ಸಂಗನಬಸವಣ್ಣಾ ? ॥೫೩೬॥

೧೨೩೧

ತನುವಿನ ಗುಣವ ವಿವರಿಸಿಹೆನೆಂದೆಡೆ, ಮನ ಶುದ್ಧವಾಗಬೇಕು.
ಮನದ ಗುಣವ ವಿವರಿಸಿಹೆನೆಂದೆಡೆ ಇಂದ್ರಿಯಂಗಳು, ಶುದ್ಧವಾಗಬೇಕು.
ತನು ಮನ ಇಂದ್ರಿಯಂಗಳು ಶುದ್ಧ ಸುಯಿಧಾನವಾಗಿ
ಲಿಂಗಮುಖಕ್ಕೆ ವೇದ್ಯವಾದಲ್ಲದೆ
ಗುಹೇಶ್ವರನ ಬೆರಸಬಾರದು ಕೇಳಾ ತಾಯೆ. ॥೫೩೭॥

೧೨೩೨

ತನುವಿನಲ್ಲಿ ತನು ಸವೆಯದು, ಮನದಲ್ಲಿ ಮನ ಸವೆಯದು,
ಧನದಲ್ಲಿ ಧನ ಸವೆಯದು.
ಭಕ್ತಿಯುಕ್ತಿಯ ಮಾತು ನಿನಗೇಕೆ ಹೇಳಾ ಬಸವಾ ?
ಮಾಟಕೂಟವೆಂಬ ಕೀರ್ತಿವಾರ್ತೆಗೆ ಸಿಲುಕಿ
ಜಂಗಮವೆ ಲಿಂಗವೆಂಬುದ ಮರೆದೆಯೆಲ್ಲಾ ಬಸವಣ್ಣಾ !
ಗುಹೇಶ್ವರನ ಶರಣರಿಗೆ ತ್ರಿಕರಣವನೊಪ್ಪಿಸಿದಲ್ಲದೆ
ಭಕ್ತನಾಗಬಾರದು ಕಾಣಾ ಸಂಗನಬಸವಣ್ಣಾ. ॥೫೩೮॥

೧೨೩೩

ತನುವಿನಲ್ಲಿಪ್ಪ ಲೋಭವ ಮನವ ಕದ್ದು ಮಾತನಾಡಿದಡೆ
ಆ ತನುವೆ ಮನೋರೂಪವಾಗಿ ಕಾಣಬರುತ್ತದೆ.
ಆ ಮನದಲ್ಲಿ ಬಯಕೆ ಸಮರತಿಯಾಗದಾಗಿ;
ಕಾಮ(ಯ?)ದ ಕರುಳು ಲೋಭದ ಬಯಕೆಯೊಳಗದೆ.
ಅರಿದೆನೆಂದು ಬರುಮಾತ ನುಡಿದಡೆ
ನಮ್ಮ ಗುಹೇಶ್ವರಲಿಂಗವು ಮೆಚ್ಚ ನೋಡಾ
ಮಡಿವಾಳ ಮಾಚಯ್ಯಾ. ॥೫೩೯॥

೧೩೪

ತನುವೆಂಬ ಏರಿಗೆ ಮನವೆಂಬ ಕಟ್ಟೆಯ ಮಾಡಿ,
ಬಲಿದು ಷಡ್ವಿಧಭಕ್ತಿಯೆಂಬ ಸೋಪಾನದಿಂದ
ಪರಮಾನಂದವೆಂಬ ಜಲವ ತುಂಬಿ
ಕೆರೆಯ ಕಟ್ಟಬಲ್ಲವರನಾರನೂ ಕಾಣೆ !
ನಾನು ಕಟ್ಟಿದ ಕೆರೆ ಸ್ಥಿರವಾಯಿತ್ತು ಗುಹೇಶ್ವರಾ ನಿಮ್ಮಾಣೆ. ॥೫೪೦॥

೧೩೫

ತನುವೆಂಬ ದೇವಸ್ಥಾನದೊಳಗೆ ಮಸ್ತಕಾಗ್ರವೆಂಬ ಸೆಜ್ಜಾಗೃಹದಲ್ಲಿ
ಪ್ರಾಣಲಿಂಗಸ್ವಯಂಬ ಪ್ರತಿಷ್ಠೆಯಾಗಿರಲು,
ಗುರುವೆಂಬ ಅರ್ಚಕನು ಮಂತ್ರವೆಂಬ ಆಗಮಿಕನು ಸಹ
ಲಿಂಗವೆಂಬ ಉಚ್ಚಾಯ ವಿಗ್ರಹವನು ಕರಸ್ಥಲವೆಂಬ ರಥದಲ್ಲಿ
ಮೂರ್ತಿಗೊಳಿಸಿ –
ಆ ಕರಸ್ಥಲವೆಂಬ ರಥಕ್ಕೆ ಜ್ಞಾನಕ್ರಿಯೆ ಎರಡು ಪಾದದ್ವಯ ಎರಡು ಕೂಡಿ
ನಾಲ್ಕು ಗಾಲಿಗಳಂ ಹೂಡಿ, ಪಂಚೇಂದ್ರಿಯಗಳೆಂಬ ಪತಾಕೆಗಳಂ ಧರಿಸಿ
ಏಕೋಭಾವವೆಂಬ ಕಳಸವನಿಟ್ಟು, ದಶವಾಯುಗಳೆಂಬ ಪಾಶವಂ ಬಂಧಿಸಿ
ಷಡಂಗಗಳೆಂಬ ಮೊಳೆಗಳಂ ಬಲಿದು, ಸಪ್ತಧಾತುವೆಂಬ
ಝಲ್ಲಿ ಪಟ್ಟೆಯನಲಂಕರಿಸಿ
ಅಷ್ಟಮದ ಸಪ್ತವ್ಯಸನಂಗಳೆಂಬ ಆನೆ ಕುದುರೆಗಳು ಸಹ
ಮಹಾನಾದವೆಂಬ ಭೇರಿ ವಾದ್ಯಂಗಳಿಂ
ಷೋಡಶವಿಕಾರಂಗಳೆಂಬ ನರ್ತಕೀಮೇಳದಾರತಿಯಿಂ
ಅಂತಃಕರಣ ಚತುಷ್ಟಯಗಳೆಂಬ ಚಾಮರಧಾರಕರಿಂ
ಮನವೆಂಬ ಹೊರಜೆಯಿಂ ಕರಣಂಗಳೆಂಬ ಕಾಲಾಳ್ಗಳಿಂ – ಪಿಡಿಸಿ, –
ಸುಬುದ್ಧಿಯೆಂಬ ಭೂಮಿಯಲ್ಲಿ ಆನಂದವೆಂಬರಸು ರಥಮಂ ನಡೆಸಿ
ನೆನಹು ನಿಷ್ಪತ್ತಿಯೆಂಬ ಸ್ಥಾನದಲ್ಲಿ ನಿಲಿಸಿ –
ಇಷ್ಟಲಿಂಗವೆಂಬ ಉಚ್ಚಾಯ ವಿಗ್ರಹವನ್ನು
ಹೃದಯಕಮಲವೆಂಬ ಅಂತರಾಳದಲ್ಲಿ ಮೂರ್ತಿಗೊಳಿಸಿ
ಆನಂದವೆಂಬ ಅರಸು ನಿರಾಳವೆಂಬ ಅಪರಿಮಿತ ಪಟ್ಟಣವ
ಪ್ರವೇಶವಾದನು ಕಾಣಾ ಗುಹೇಶ್ವರಾ. ॥೫೪೧॥

೧೩೬

ತನು ಶುದ್ಧವಾಯಿತ್ತು ಬಸವಾ ಇಂದೆನ್ನ.
ಮನ ಶುದ್ಧವಾಯಿತ್ತು ಬಸವಾ ಇಂದೆನ್ನ.

ಭಕ್ತಿ ಯುಕ್ತಿ ಮುಕ್ತಿ ಶುದ್ಧವಾಯಿತ್ತು ಬಸವಾ ಇಂದೆನ್ನ.
ಇಂತೀ ಸರ್ವವೂ ಶುದ್ಧವಾಯಿತ್ತು ಬಸವಾ ಇಂದೆನ್ನ.
ನಮ್ಮ ಗುಹೇಶ್ವರಲಿಂಗಕ್ಕೆ
ಆದಿಯಾಧಾರವಾದೆಯೆಲ್ಲಾ ಬಸವಣ್ಣಾ ನೀನಿಂದು. ॥೫೪೨॥

೧೨೩೭

ತಪವೆಂಬುದು ತಗಹು, ನೇಮವೆಂಬುದು ಬಂಧನ,
ಶೀಲವೆಂಬುದು ಸೂತಕ, ಭಾಷೆಯೆಂಬುದು ಪ್ರಾಣ ಘಾತಕ.–
ಇಂತೀ ಚತುರ್ವಿಧದೊಳಗಲ್ಲ
ಗುಹೇಶ್ವರಾ ನಿಮ್ಮ ಶರಣರು ಅಗ್ರಗಣ್ಯರು. ॥೫೪೩॥

೧೨೩೮

ತಪ್ಪ ಹೊರಿಸಿ ಹೊರಟೆಹೆನೆಂಬುದು ಸತ್ಯವೆ ?
ತನು, ಸೀರೆಯನುಳಿದು ನಿರ್ವಾಣವಾದಲ್ಲಿ
ಮನದ ಭ್ರಾಂತು ನಿಶ್ಚಯವಾಗದು !
ಕೇಶವೆಂಬ ಸೀರೆ ಅಂಗಕ್ಕೆ ಮರೆಯಾಯಿತ್ತು.
ಅಪಮಾನವೆಂತು ಹರಿಯಿತ್ತು ?
ಅದು ಗುಹೇಶ್ವರಲಿಂಗಕ್ಕೆ ಸಲ್ಲದ ವೇಷ ! ॥೫೪೪॥

೧೨೩೯

ತಮ್ಮ ತಾವರಿದೆಹೆವೆಂಬರು, ತಮ್ಮ ತಾವರಿವ ಪರಿಯೆಂತೋ ?
ಎಲ್ಲರನೂ ಕಾಬ ಕಣ್ಣು ತನ್ನ ಕಾಬುದೆ ?
ತನ್ನರಿವಿಂದ ತಾ ಭಿನ್ನವಾಗಲರಿವನೆ ?
ತನ್ನ ತಾನಿದಿರಿಟ್ಟು ಕಾಬಾತನೊಬ್ಬನುಂಟೆ ?
ತನ್ನ ತಾನರಿವ ಪರಿಯ ಗುಹೇಶ್ವರಾ ನಿಮ್ಮ ಶರಣ ಬಲ್ಲ. ॥೫೪೫॥

೧೨೪೦

ತಮ್ಮ ತಾವರಿಯರು ಹೇಳಿದಡೂ ಕೇಳರು.
ಆರರ ಹೊಲಬ ಏನೆಂದರಿಯರು.
ಎಂಟರ ಕಂಟಕವ ಮುನ್ನರಿಯರು.
ಏರಿದ ಬೆಟ್ಟವ ಇಳಿಯಲರಿಯದವರ ಏನೆಂಬೆ ಗುಹೇಶ್ವರಾ ? ॥೫೪೬॥

೧೨೪೧

ತಲೆಯಲಟ್ಟುಂಬುದ ಒಲಿಯಲಟ್ಟುಂಡಡೆ ಹೊಗೆ ಘನವಾಯಿತ್ತು.
ತಲೆಯಲಟ್ಟುಂಡಾತ ಮಹಾಪ್ರಸಾದಿ,
ಈಶ್ವರಸ್ವರವ ನುಡಿಯಲರಿಯದೆ ಬೀಸರವೋದರಣ್ಣಗಳೆಲ್ಲ.
ಈಶ್ವರ ಸ್ವರವ ನುಡಿದರೆ ತಾನೆ ಶಿವನು
ಗುಹೇಶ್ವರನೆಂಬುದು ಬೇರಿಲ್ಲ ಕಾಣಿರೊ. ॥೫೪೭॥

೧೨೪೨

ತಲೆಯಿಲ್ಲದ ಮೃಗ ಒಡಲಿಲ್ಲದೆ ಆಹಾರವ ಕೊಂಡಿತ್ತು.
ಹೆಜ್ಜೆ ಇಲ್ಲದೆ ಹರಿಯಿತ್ತು !
ಅದ ಶುದ್ಧಿಯ ಮಾಡ ಹೋದಾತನಿನ್ನೂ ಮರಳನು.
ವೆಜ್ಜವಿಲ್ಲದ ಮಣಿಯ ದಾರವಿಲ್ಲದೆ ಪವಣಿಸುವ
ನಿಮ್ಮ ಶರಣನ ಪರಿಯ ನೋಡಾ ಗುಹೇಶ್ವರಾ ! ॥೫೪೮॥

೧೨೪೩

ತಾ ಕೇಳಿ, ನೋಡಿ, ಮುಟ್ಟಿ ಮನವರಿದ ಸುಖವ
ಲಿಂಗಕ್ಕೆ ಕೊಡುವುದೆಂತೊ ಅಂಗ ಮನವೆಂಬವನು ?
ಲಿಂಗದ ಪರಿಪೂರ್ಣವನು ಕಾಣದಿಹ
ಅಂಗಹೀನರಿಗೇಕೆ ವ್ರತಾಚಾರದ ಹೊಲಬು ?
ಜೀರ್ಣಪರ್ಣ – ರವಿರಶ್ಮಿ ಜ್ಞೀಯದಂತೆ (ನ್ಯಾಯದಂತೆ?)
ಜಗದೊಳಗೆ ಏತರಲ್ಲಿಯೂ ಖಂಡಿತವಿಲ್ಲದೆ ಗುಹೇಶ್ವರನಿಪ್ಪ
ಭಕ್ತದೇಹಿಕನಾಗಿ ! ॥೫೪೯॥

೧೨೪೪

ತಾನಿಟ್ಟ ಬೇತಾಳ ತನ್ನನೆ ತಿಂದಿತ್ತೆಂಬಂತೆ,
ನಿನ್ನ ಭವಾವಳಿಯನೆತ್ತುವನ್ನಕ್ಕ
ಎನ್ನ ಮರವೆ ಎನಗೆ ಎಚ್ಚರಿಕೆಯಾಯಿತ್ತು,
ಎನ್ನ ಪೂರ್ವ ನಿರ್ವಾಹವಾಯಿತ್ತು !
ನಿಮ್ಮ ವರ್ಮ ತಿಳಿಯದೆನಗೆ, – ಅದೆಂತೆಂದಡೆ:
ಹಿಂದೆ ನೀನೇನಾಗಿದ್ದೆ ಎಂಬುದನು ಅರಿಯೆನಾಗಿ.
ಇಂದು ನಿಮ್ಮ ಮನೆಯಲಿ ಆರೋಗಣೆಯಾಗದು ಕಾಣಾ
ಸಂಗನಬಸವಣ್ಣ ನಮ್ಮ ಗುಹೇಶ್ವರಲಿಂಗಕ್ಕೆ ! ॥೫೫೦॥

೧೨೪೫

ತಾನೆಂದೆನಲೊಲ್ಲದೆ ಗುರುವೆಂದು ಹಿಡಿದವನ,
ಗುರುವೆಂದಲ್ಲಿಯೆ ನೀನೆಂದು ನಡೆದವನ,
ನೀನೆಂದಲ್ಲಿಯೆ ಲಿಂಗಜಂಗಮದ ಸಕೀಲಸಂಬಂಧವ ನೆಲೆಗೊಳಿಸಿದವನ,
ಲಿಂಗಜಂಗಮದಲ್ಲಿ ತನ್ನ ಮರೆದು ಕರಿಗೊಂಡ ಲಿಂಗೈಕ್ಯನ,
ಗುಹೇಶ್ವರಲಿಂಗದಲ್ಲಿ ಚನ್ನಬಸವಣ್ಣನ
ಶ್ರೀಪಾದಕ್ಕೆ ನಮೋ ನಮೋ ಎನುತಿರ್ದೆನು. ॥೫೫೧॥

೧೨೪೬

ತಾಪತ್ರಯದಲ್ಲಿ ಬೇವ ಒಡಲ ಹಿಡಿದು ತಂದು
ಜ್ಞಾನವೆಂಬ ಉರಿಗೆ ಆಹುತಿಯ ಕೊಟ್ಟವನ,
ಜ್ಞಾನವೆಂಬ ಕಾಯವ ಹಿಡಿದು ತಂದು
ನಿಶ್ಶೂನ್ಯವೆಂಬ ತೇಜದಲ್ಲಿ ಸುಟ್ಟವನ,
ನಿಶ್ಶೂನ್ಯವೆಂಬ ಶಬ್ದವ ಸುಟ್ಟು, ಭಸ್ಮವ ಧರಿಸಿದ ಲಿಂಗೈಕ್ಯನ,
ಲೋಕದ ಸ್ಥಿತಿ–ಗತಿಯ ಮರೆದು, ನಿರ್ವಾಣದಲ್ಲಿ ನಿಂದವನ,
ಗುಹೇಶ್ವರಲಿಂಗದಲ್ಲಿ ತನ್ನ ಮರೆದ ಅಲ್ಲಯ್ಯನ ಕೋಪದಲ್ಲಿ ಕಿಚ್ಚಿನಲ್ಲಿ
ಸುಟ್ಟೆಹೆನೆಂಬ ಸಿದ್ಧರಾಮಯ್ಯನನೇನೆಂಬೆನು ? ॥೫೫೨॥

೧೨೪೭

ತಾ ಬಾಳಲಾರೆ ವಿಧಿಯ ಬೈದನೆಂಬ ನಾಣ್ಣುಡಿ
ದಿಟವಾಯಿತ್ತಲ್ಲಾ ಬಸವಣ್ಣಾ.
ಅವಧಾನ ತಪ್ಪಿ ಆಚಾರಗೆಟ್ಟು ನಡೆದು
ಶಿವನಾಧೀನವೆಂದಡೆ ಹೋಹುದೆ ?
ಗುಹೇಶ್ವರಲಿಂಗದಲ್ಲಿ ಈ ಬಣ್ಣಿಗೆಯ ಮಾತು ಸಲ್ಲದು ಕೇಳಾ
ಸಂಗನಬಸವಣ್ಣಾ. ॥೫೫೩॥

೧೨೪೮

ತಾಯಿಗಾದ ಸುಖದುಃಖಂಗಳು ಬಸಿರ ಶಿಶುವಿಂಗೆ ನೋಡಯ್ಯಾ.
ಶಿವಶರಣರಿಗೆ ಮಾಡಿದ ಸುಖದುಃಖಗಳು ಶಿವನ ತಾಗುವುವು.
ಕರಣವುಳ್ಳವರು ಮರಣವಿಲ್ಲದವಂಗೆ ಮುಳಿದಡೆ
ತನುವುಳ್ಳವರ ಮುಟ್ಟುವುದಲ್ಲದೆ. ಒಡಲಿಲ್ಲದಾತನ ಮುಟ್ಟಬಲ್ಲುದೆ ?
ಗುಹೇಶ್ವರಾ ಕೆಂಡವ ಒರಲೆ ಮುಟ್ಟಬಲ್ಲುದೆ ? ॥೫೫೪॥

೧೨೪೯

ತಾಯಿ – ತಂದೆಯಿಲ್ಲದ ಕಂದಾ,
ನಿನಗೆ ನೀನೆ ಹುಟ್ಟಿ ಬೆಳೆದೆಯಲ್ಲಾ !
ನಿನ್ನ ಪರಿಣಾಮವೆ ನಿನಗೆ ಪ್ರಾಣತೃಪ್ತಿಯಾಗಿರ್ದೆಯಲ್ಲಾ !
ಭೇದಕರಿಗೆ ಅಭೇದ್ಯನಾಗಿ ನಿನ್ನ ನೀನೆ ಬೆಳಗುತ್ತಿರ್ದೆಯಲ್ಲಾ !
ನಿನ್ನ ಚರಿತ್ರ ನಿನಗೆ ಸಹಜ ಗುಹೇಶ್ವರಾ. ||೫೫೫||

೧೨೫೦

ತಾಯಿಯಿಲ್ಲದ ಶಿಶುವಿಂಗೆ,
ಶಿಶುವಿಲ್ಲದ ತಾಯಿ ಮೊಲೆಯನೂಡಿದಳು.
ಮೊಲೆವಾಲನುಂಡ ಶಿಶು ತಾಯ ತಕ್ಕೈಸಿದಡೆ
ತಾಯಿ ಆ ಶಿಶುವಿಂಗೆ ಸತಿಯಾದಳಲ್ಲಾ !
ಸತಿಯ ಸಂಗದ ಸುಖವ ಪತಿಯಿಲ್ಲ (ಯಿಂ?)ದರಿದಲ್ಲಿ
ಸತಿ ಪತಿ ಎಂಬೆರಡೂ ಅಳಿಯಿತ್ತು ನೋಡಾ !
ಈ ನಿಜದ ನಿರ್ಣಯವ ಎನಗೆ ತೋರಿದ
ಗುಹೇಶ್ವರನ ಶರಣ ಮಡಿವಳ ಮಾಚಿತಂದೆಗಳ ಪಾದಕ್ಕೆ
ನಮೋ ನಮೋ ಎನುತಿರ್ದೆನು. ||೫೫೬||

೧೨೫೧

ತಾ ಹೆಳವ; ಎಡಹೊತ್ತಿನ ಪಯಣ;
ಒಡ್ಡಿದ ಮಳೆಯ ಮುಗಿಲು,
ಸೋರುವ ಮನೆ, ನೆಲದ ಹಾಸಿಕೆ,
ಕೊರಳಲ್ಲಿ ಮೂರು ಮಣ್ಣ ಮಣಿ,
ಒಂದೆ ಕಲ್ಲೊರಳು, ಮೇಣದೊನಕೆ,
ಹಳೆ ಅಕ್ಕಿ, ಹೊಸ ಭಾಂಡ –
ಹಸಿಯ ಬೆರಣಿಯ ತಾಳಿಯನಿಕ್ಕಿ,
ಕಿಚ್ಚಿಲ್ಲದೆ ಒಲೆಯನುರುಹಿ ಓಗರವನಡಲು,
ಗುಹೇಶ್ವರಲಿಂಗವು ಒಡೆದ ತಳಿಗೆಯ [ಲಿ?]
ಆರೋಗಣೆಯ ಮಾಡಿದನು. ||೫೫೭||

೧೨೫೨

ತಾಳು ಬೋಳು ಕಟ್ಟಿಗೆ ಕರ್ಪರವೆಂದೆಂಬರು.
ತಾಳು ಬೋಳು ಕಟ್ಟಿಗೆ ಕರ್ಪರವಾವುದೆಂದರಿಯರು.
ತಾಳು: ತನುಗುಣಾದಿಗಳ ಪ್ರಾಣಗುಣಾದಿಗಳ
ತಾಳಿಕೊಂಡಿರಬಲ್ಲಡೆ ತಾಳು.
ಬೋಳು: ಭ್ರಮೆಯಿಲ್ಲದೆ ಬಂಧನವಿಲ್ಲದೆ ಸಂಸಾರ ವಿಷಯಗಳ ಬೋಳೈಸಿ
ತನ್ನಿಚ್ಛೆಗೆ ನಿಲಿಸಿಕೊಂಡಿರಬಲ್ಲಡೆ ಬೋಳು.
ಕಟ್ಟಿಗೆ: ಕರಣಾದಿ ಗುಣಂಗಳ ನಿಲಿಸಿಕೊಂಡಿರಬಲ್ಲಡೆ ಕಟ್ಟಿಗೆ.
ಕರ್ಪರ: ಪರವ ಅರಿದಿರಬಲ್ಲಡೆ ಕರ್ಪರ–
ಇಂತೀ ಚತುರ್ವಿಧವನರಿದವರ ಪರಮಾರಾಧ್ಯರೆಂಬೆ ಕಾಣಾ
ಗುಹೇಶ್ವರಾ. ॥೫೫೮॥

೧೨೫೩

ತಿಂಬ ಗಂದೆಯ ಮೇಲೆ ಉಗುರು ಬಿದ್ದಂತಾಯಿತ್ತು.
ಅರಸುವ ಬಳ್ಳಿ ಕಾಲ ಸುತ್ತಿದಂತಾಯಿತ್ತು.
ನಾನು ಬಯಸುವ ಬಯಕೆ ತಾರ್ಕಣೆಗೆ ಬಂದಿತ್ತು.
ಗುಹೇಶ್ವರಲಿಂಗದಲ್ಲಿ.
ಎನಗೂ ನಿನಗೂ ಒಂದಾದ ಪರಿ ಎಂತು ಹೇಳಾ
ಚೆನ್ನಬಸವಣ್ಣಾ ? ॥೫೫೯॥

೧೨೫೪

ತಿಳಿದಿರ್ದ ಮಡುವಿನೊಳಗೆ ಸುಳಿಸುಳಿದಾಡುತ್ತಿದೆ
ಒಂದು ಸುವರ್ಣದ ಬಿಂದು !
ಅದು ಹಿಂದು ಮುಂದಾಗಿ ನೋಡಿದವರಿಗೆಲ್ಲ ಕಾಣಬಾರದು.
ಮಡುವ ತುಳುಕದೆ ದಡವ ಸೋಂಕದೆ ಹಿಡಿಯಬಲ್ಲಡೆ
ಗುಹೇಶ್ವರನೆಂಬ ಲಿಂಗವು ಈಗಳೆ ಸಾಧ್ಯ. ॥೫೬೦॥

೧೨೫೫

ತೆರಹಿಲ್ಲದ ಘನವ ಅರಸಿಹೆನೆಂದಡೆ ಕಾಣಬಾರದು.
ಅದೇನು ಕಾರಣವೆಂದಡೆ:
ಆ ಅರಸುವಾತನು ತಾನೆ ವಸ್ತುವಾದ ಕಾರಣ.

ವಿಚಾರಕ್ಕೆ ಬಾರದ[ದು]
ನಿಶ್ಚಲಬ್ರಹ್ಮವೆಂಬುದು ಗುಹೇಶ್ವರಾ. ॥೫೬೧॥

೧೨೫೬

ತೆರಹಿಲ್ಲದ ಘನವ ಮನ ಒಳಕೊಂಡು
ಆ ತಲೆಯಿಲ್ಲದ (ತಲಹಿಲ್ಲದ?) ಮನವ ಘನ ಒಳಕೊಂಡು
ತನಗೆ ತಾ ತರಹರವಾದ ಬಳಿಕ
ಇನ್ನು ಮರಳಿ ಇಂಬುಗೊಡಲುಂಟೆ ?
ಗುಹೇಶ್ವರನ ಲೀಲೆ ಮಾಬನ್ನಕ್ಕರ
ಉರಿಯೊಳಗಣ ಕರ್ಪೂರದಂತಿರಬೇಕು ಕಾಣಾ ಸಿದ್ಧರಾಮಯ್ಯಾ. ॥೫೬೨॥

೧೨೫೭

ತೆರೆಯ ಮರೆಯ ಕುರುಹೆಂಬುದೇಸೊ
ಒಳಗೆ ಲಿಂಗವನನುವಿಡಿದ ಬಳಿಕ ?
ಪೂಜಿಸುವ ಭಕ್ತನಾರೊ ? ಪೂಜಿಸಿಕೊಂಬ ದೇವನಾರೊ ?
ಮುಂದು ಹಿಂದು, ಹಿಂದು ಮುಂದಾಯಿತ್ತು
ಗುಹೇಶ್ವರಾ ನಾನು ನೀನು, ನೀನು ನಾನಾದ ಬಳಿಕ
ಮತ್ತೇನುಂಟು ಹೇಳಾ ? ॥೫೬೩॥

೧೨೫೮

ತೋರಬಾರದ ಘನವ ಹೇಳಲೆಂದೇನಯ್ಯಾ ?
ಹೇಳಬಾರದ ಘನವ ತೋರಲೆಂದೇನಯ್ಯಾ ?
ಶರಸಂಧಾನದ ಪರಿಯಲ್ಲ ನೋಡಾ !
ಗುಹೇಶ್ವರಲಿಂಗವು ಕಲ್ಪಿತವಲ್ಲ ನೋಡಯ್ಯಾ. ॥೫೬೪॥

೧೨೫೯

ತೋರಬಾರದ ಠಾವಿನಲ್ಲಿ ಒಂದು ಹೊಂಬಣ್ಣ ಸುಳಿಯಿತ್ತು.
'ಸೋಽಹಂ ಸೋಽಹಂ'ಎಂದುದು ಬ್ರಹ್ಮವು.
ಮುಟ್ಟಿಯೂ ಮುಟ್ಟದ ಬ್ರಹ್ಮವ ನೆಟ್ಟನೆ ಮುಂದರಿದೆ.
ಕಟ್ಟಳೆಯಿಲ್ಲದ ಇರವು ಗುಹೇಶ್ವರಾ ನಿಮ್ಮ ನಿಲವು. ॥೫೬೫॥

೧೨೬೦

ತೋರುವುದೆಲ್ಲ ಬೇರಾಗಿ ಕಾಂಬುದು,
ಕಂಡುದ ಬಿಡುವುದು ಕಾಣದುದ ಹಿಡಿವುದು.
ಕಾಣದುದ ಕಂಡೆವೆಂದು ಬಿಟ್ಟಣ್ಣಗಳು
ನಟ್ಟನಡುನೀರೊಳಗೆ ಕೆಟ್ಟ ಕೇಡ ನೋಡಾ ಗುಹೇಶ್ವರಾ. ॥೫೬೬॥

೧೨೬೧

ತ್ರಿನದಿಯ ಮಧ್ಯದಲ್ಲೈದು ಕುದುರೆಯ ಕಟ್ಟಿದ್ದ ಕಂಭ ಮುರಿಯಿತ್ತು.
ಎಂಟಾನೆ ಬಿಟ್ಟೋಡಿದವು.
ಹದಿನಾರು ಪ್ರಜೆ ಬೊಬ್ಬಿಡುತ್ತಿದ್ದವು.
ಶತಪತ್ರಕಮಲಕರ್ಣಿಕಾ ಮಧ್ಯದಲ್ಲಿ
ಗುಹೇಶ್ವರಲಿಂಗವು ಮುಗ್ಧವಾಗಿರ್ದನು. ॥೫೬೭॥

೧೨೬೨

ತ್ರಿಪುರವನುರುಹಿದ ತ್ರಿಣೇತ್ರನಲ್ಲ,
ಅಂಧಕಾಸುರನ ಮೆಟ್ಟಿ ನಾಟ್ಯವನಾಡಿದಾತನಲ್ಲ,
ಖಂಡಕಪಾಲಿಯಲ್ಲ ಮುಂಡಧಾರಿಯಲ್ಲ,
ಮಂಡಲದೊಳಗೆ ಬಂದು ಸುಳಿವಾತನಲ್ಲ,
ಈಶ್ವರನಲ್ಲ ಮಹೇಶ್ವರನಲ್ಲ,
ಗುಹೇಶ್ವರನೆಂಬ ಲಿಂಗ ಅಪಾರ ಮಹಿಮನು. ॥೫೬೮॥

೧೨೬೩

ತ್ರಿಭುವನವೆಂಬ ಪಂಜರದೊಳಗೆ, ಸಂಸಾರಚಕ್ರದಲ್ಲಿ –
ಹೊನ್ನು ಪ್ರಾಣವೆ ಪ್ರಾಣವಾಗಿ, ಹೆಣ್ಣು ಪ್ರಾಣವೆ ಪ್ರಾಣವಾಗಿ
ಮಣ್ಣು ಪ್ರಾಣವೆ ಪ್ರಾಣವಾಗಿ,
ಆ ಸುಖದ ಸೊಕ್ಕಿನಲ್ಲಿ ಈಸಿಯಾಡುತ್ತಿರ್ದರಲ್ಲಾ,
ಬಹುವಿಧದ ವ್ಯವಹಾರ ವೇಧಿಸಿದವರು ಗುಹೇಶ್ವರಾ. ॥೫೬೯॥

೧೨೬೪

ದುಷ್ಟನಿಗ್ರಹ ಶಿಷ್ಟಪರಿಪಾಲಕನಪ್ಪ ದಿವ್ಯವಸ್ತು
ಶಕ್ತಿಗೊಳಗಾಯಿತ್ತಾಗಿ
ಬಚ್ಚಬಯಲೆಂಬುದಕ್ಕುಪಮಾನವಿಲ್ಲಯ್ಯ [ಗುಹೇಶ್ವರ]. ॥ ೫೭೦॥

೧೨೬೫

ದೇವನೊಲಿದ, ನೀನೊಲಿದೆ – ಎಂಬುದು ಅದಾವುದಕ್ಕಾ ?
ಭಾವಶುದ್ಧವಾದಲ್ಲಿ ಸೀರೆಯುನಳಿದು ಕೂದಲು ಮರೆಸಲೇತಕ್ಕೆ ?
ಅದು ಅಂತರಂಗದ ನಾಚಿಕೆ ಬಾಹ್ಯದಲ್ಲಿ ತೋರಿತ್ತು.
ಅದು ಗುಹೇಶ್ವರಲಿಂಗಕ್ಕೆ ಒಲವರವಲ್ಲ. ॥೫೭೧॥

೧೨೬೬

ದೇವಲೋಕದವರ ತೃಣವೆಂಬೆ.
ಮರ್ತ್ಯಲೋಕದವರ ಕ್ಷಣವೆಂಬೆ.
ಅಹಂಕಾರವೆಂಬ ಶೃಂಗಾರವ ಮಾಣೆ !
ಆನಲ್ಲದೆ ಅನ್ಯವ ಅಲ್ಲೆಂಬೆ
ಗುಹೇಶ್ವರನೆಂಬವನು ತಾನೆ ತಾನಾಗಿ. ॥೫೭೨॥

೧೨೬೭

ದೇಹಭಾವವಳಿದಲ್ಲದೆ ಜೀವಭಾವವಳಿಯದು.
ಜೀವಭಾವವಳಿದಲ್ಲದೆ ಭಕ್ತಿಭಾವವಳವಡದು.
ಭಕ್ತಿಭಾವವಳವಟ್ಟಲ್ಲದೆ ಅರಿವು ತಲೆದೋರದು.
ಅರಿವು ತಲೆದೋರಿದಲ್ಲದೆ ಕುರುಹು ನಷ್ಟವಾಗದು.
ಕುರುಹು ನಷ್ಟವಾದಲ್ಲದೆ ಮಾಯೆ ಹಿಂಗದು.
ಇದು ಕಾರಣ; –
ಕಾಯದ ಜೀವದ ಹೊಲಿಗೆಯ ಅಳಿವ ಭೇದವ ತಿಳಿಯಬಲ್ಲಡೆ
ಗುಹೇಶ್ವರಲಿಂಗದ ಅರಿವು ಸಾಧ್ಯವಪ್ಪುದು ಕಾಣಾ ಸಿದ್ಧರಾಮಯ್ಯಾ. ॥೫೭೩॥

೧೨೬೮

ದೇಹಿಗೆ ದೇಹಿಯಾಗಿರ್ಪುದರ ಭೇದವನು ಆರು ಬಲ್ಲರು ?
ಹರಿಬ್ರಹ್ಮಾದಿಗಳರಿಯರು, ಮನುಮುನಿಗಳರಿಯರು,
ಸಿದ್ಧಸಾಧಕರರಿಯರು.
ಅರಿವಿಂಗೆ ಅರಿವಾಗಿರ್ಪುದ್ದನು ನಿನ್ನ ಅರಿವಿಂದ ಅರಿಯಬಹುದೆ ?
ಗುಹೇಶ್ವರಲಿಂಗವನರಿವಡೆ ನೀನರಿಯದಂತಿರಬೇಕು. ॥೫೭೪॥

೧೨೬೯

ದ್ರವ್ಯ ನೀನು ದ್ರವ್ಯಾರ್ಥ ನೀನು; ಪದ ನೀನು, ಪದಾರ್ಥ ನೀನು.
ಸಕಲ ನೀನು ನಿಷ್ಕಲ ನೀನು.
ಸಕಲ ನಿಷ್ಕಲಾತ್ಮಕ ಪರಿಪೂರ್ಣ ಶಿವನಲ್ಲದೆ ಅನ್ಯ ಭಿನ್ನಭಾವ ಉಂಟೆ ?
ಸಕಲ ನಿಷ್ಕಲ ತತ್ವಂಗಳು; ನಿಮ್ಮೊಳಗೆ ಸಮಾಸವನೆಯ್ದುವೆವೆಂದು
ತಮ್ಮ ತಮ್ಮ ಅಂಗದ ಮೇಲೆ ಸರ್ವಪದಾರ್ಥಂಗಳ ಹೆಸರಿಟ್ಟು
ಹೊತ್ತುಕೊಂಡೈದಾವೆ ನೋಡಾ !
ಅದೆಂತೆಂದಡೆ:
"ದ್ರವ್ಯಾರ್ಥಂ ಚ ಮಹಾದೇವೋ ದ್ರವ್ಯರೂಪೋ ಮಹೇಶ್ವರಃ ।
ಇತಿ ಮೇ ಭೇದನಂ ನಾಸ್ತಿ ಸರ್ವರೂಪಸ್ಸದಾಶಿವಃ" ॥ –
ಇಂತೆಂದುದಾಗಿ – ನಾದ ನೀನು, ಬಿಂದು ನೀನು, ಕಳೆ ನೀನು,
ಕಳಾತೀತ ನೀನು ಗುಹೇಶ್ವರಾ. ॥೫೭೫॥

೧೨೭೦

ಧರೆಯ ಮೇಲೊಂದು ಪಿರಿದಪ್ಪ ಸಂತೆಯ ನೆರವಿಗೆ ಬಂದವರನೇನೆಂಬೆನು !
ಪರಿಪರಿಯ ಭಂಡದ ವ್ಯವಹಾರದೊಳಗೆ ಕೊಡಲಿಲ್ಲ, ಕೊಳಲಿಲ್ಲ.
ವ್ಯಥಾ ವಿಳಾಸವಿದೇನೊ ?
ಅರೆಮರುಳೆಂಬ ಶಿವನು,
ನೆರೆ ಮರುಳೆಂಬ ಜಗವ ಹುಟ್ಟಿಸಿದ ಪರಿಯ ಕಂಡು
ಬೆರಗಾದೆ ಗುಹೇಶ್ವರಾ. ॥೫೭೬॥

೧೨೭೧

ಧರೆಯಾಕಾಶ ಕೂಡಿ ಜಗವಾದಂತೆ,
ಕಾಯ, ಜೀವ ಕೂಡಿ ಸಾವಯವಾದಂತೆ,
ನಾದ ಬಿಂದು ಕೂಡಿ ಲಿಂಗವಾಯಿತ್ತು.
ಅದೆಂತೆಂದಡೆ:
ನಾದ ಬಿಂದು ಶಕ್ತಿ ರೂಪಾಗಿ,
ಈ ಉಭಯ ಸಂಪುಟದಿಂದ ಲಿಂಗವಾಗಿ,
ಅದು ಕಾಯ ಜೀವದಂತೆ ಕೂಡಿ ಏಕವಾದಲ್ಲಿ
ಆ ಕಾಯದಿಂದ ಜೀವ ವಿಯೋಗವಾಗಿಹುದೇ ಗುಹೇಶ್ವರಾ ? ॥೫೭೭॥

೧೨೭೨

ಧರೆಯಾಕಾಶ ತಾರಾಮಂಡಲ ಸಪ್ತಸಮುದ್ರಂಗಳಿಲ್ಲದಂದು,
ಒಂದು ಮಹಾವೃಕ್ಷವಿದ್ದಿತ್ತಯ್ಯಾ.
ಆ ವೃಕ್ಷವ ಕಂಡು ನಾನು 'ಓಂ ನಮಃ ಶಿವಾಯ' ಎನುತಿದ್ದೆನು.
ಆ ವೃಕ್ಷದಿಂದ ಷಡುಸಾದಾಖ್ಯಂಗಳು ಪುಟ್ಟಿದುವು.
ಆ ಷಡುಸಾದಾಖ್ಯಂಗಳ ನೆಳಲಲ್ಲಿ ಕುಳ್ಳಿರ್ದು
ನಾನು ಬಸವಾ ಬಸವಾ ಬಸವಾ ಎನುತಿರ್ದೆನು ಕಾಣಾ ಗುಹೇಶ್ವರಾ. ॥೫೭೮॥

೧೨೭೩

ಧರೆಯಾಕಾಶವಿಲ್ಲದಂದು, ತ್ರೈಮಂಡಲ ನೆಲೆಗೊಳ್ಳದಂದು,
ಹೋಮ ನೇಮ ಜಪ ತಪವಿಲ್ಲದಂದು ನಿಮ್ಮನಾರು ಬಲ್ಲರು ?
ಹರಿ ಬ್ರಹ್ಮಾದಿಗಳಿಗೆ ಅಗೋಚರ, ನಿರ್ಲೇಪ ನಿರಂಜನನಾಗಿ –
ವೇದಂಗಳರಿಯವು, ಶಾಸ್ತ್ರ ಸ್ಮೃತಿಗಳು ನಿಮ್ಮನರಿಯವು.
ಗಗನಕಮಲಕುಸುಮ ಪರಿಮಳದಿಂದತ್ತತ್ತಲು
ಗುಹೇಶ್ವರಾ ನಿಮ್ಮ ನಿಲವನಾರು ಬಲ್ಲರು ? ॥೫೭೯॥

೧೨೭೪

ಧೂಪ ದೀಪಾರತಿಯ ಬೆಳಗುವಡೆ, ನೀನು ಸ್ವಯಂಜ್ಯೋತಿಪ್ರಕಾಶನು.
ಅರ್ಪಿತವ ಮಾಡುವಡೆ, ನೀನು ನಿತ್ಯತೃಪ್ತನು.
ಅಷ್ಟವಿಧಾರ್ಚನೆಯ ಮಾಡುವಡೆ, ನೀನು ಮುಟ್ಟಬಾರದ ಘನವೇದ್ಯನು.
ನಿತ್ಯನೇಮಂಗಳ ಮಾಡುವಡೆ ನಿನಗೆ ಅನಂತನಾಮಂಗಳಾದವು
ಗುಹೇಶ್ವರಾ. ॥೫೮೦॥

೧೨೭೫

ಧ್ಯಾನ ಆಧ್ಯಾತ್ಮಿಕದಲ್ಲಿ ಕಂಡಹೆನೆಂಬುದು
ಜೀವನಲ್ಲದೆ ಪರಮನಲ್ಲ.
ಜಪ ತಪ ನೇಮ-ನಿತ್ಯಂಗಳಿಂದ ಕಂಡಹೆನೆಂಬುದು
ಪ್ರಕೃತಿಯಲ್ಲದೆ ಸುಚಿತ್ತವಲ್ಲ.
ಭಾವದಿಂದ ಪ್ರಮಾಣಿಸುವುದೆ ಏಕರೂಪು.
ಗುಹೇಶ್ವರಲಿಂಗವು ತಾನೆ. ॥೫೮೧॥

೧೨೭೬

ನಚ್ಚು ಮಚ್ಚಿನ ಸುಖ ಪರಿಣಾಮ ಸನ್ನಹಿತವಾದ ಬಳಿಕ,
ಇನ್ನು ಅನುಭಾವವೆಂಬುದಿಲ್ಲ – ಅಂತಿರಲಿ ನುಡಿಯ ಗಡಣ.
ಶಶಿಧರನಟ್ಟಿದ ಬೆಸನ ಮಾಡಬಂದ ಬಳಿಕ,
ಹೇಳಿದ ಮಣಿಹವ ಮಾಡುತ್ತಿಹುದಲ್ಲದೆ
ಅದು ತನ್ನಲ್ಲಿ ತಾನು ಬೆರಸುವಂದಿಗೆ ಬೆರಸಲಿ;
ಆ ದಿನಕ್ಕೆ ಬಂದು ಹೇಳುವೆವು ನಿರ್ಣಯವ.
ಗುಹೇಶ್ವರಲಿಂಗದ ಆಣತಿ ಬಪ್ಪನ್ನಬರ
ಶಿವಶರಣರೆಲ್ಲರೂ ಸಂಗನಬಸವಣ್ಣ ಸಹಿತ ನಿತ್ಯರಾಗಿ ಇರಿ. ॥೫೮೨॥

೧೨೭೭

ನಡೆದಡೆ ನಡೆಗೆಟ್ಟ ನಡೆಯ ನಡೆವುದಯ್ಯಾ.
ನುಡಿದಡೆ ನುಡಿಗೆಟ್ಟ ನುಡಿಯ ನುಡಿವುದಯ್ಯಾ.
ಒಡಲ ಹಿಡಿದಡೆ ಹಿಡಿಯದೆ ಹಿಡಿವುದಯ್ಯಾ.
ಕೂಡುವಡೆ ಕೇಡಿಲ್ಲದ ಕೂಟವ ಕೂಡುವುದಯ್ಯಾ,
ಗುಹೇಶ್ವರಾ ನಿಮ್ಮಲ್ಲಿ ನಿಲುವುದಯ್ಯಾ. ॥೫೮೩॥

೧೨೭೮

ನಡೆದಡೆ ನಿರ್ಗಮನಿ !
ಸುಳಿದಡೆ ಗತಿವಿರಹಿತನನು ಏನೆಂಬೆನು ? ಎಂತೆಂಬೆನು ?
ಅಘಟಿತಘಟಿತನನು, ಏನೆಂಬೆನು ಎಂತೆಂಬೆನು ?
ಅಖಂಡಿತ ಮಹಿಮನನು ಏನೆಂಬೆನು ಎಂತೆಂಬೆನು ?
ಆದಿಯಿಂದತ್ತತ್ತ ಗುಹೇಶ್ವರನ ಶರಣ ಅಲ್ಲಮಯ್ಯನ ಸುಳುಹು
ಜಗಕ್ಕೆ ಪಾವನ ! ॥೫೮೪॥

೧೨೭೯

ನಡೆ ನುಡಿಯಿಲ್ಲದ ಗುರುವ ಕಂಡು
ಉಪದೇಶವ ಪಡೆಯಲೆಂದು ಹೋದಡೆ;
ಒಡನೆ ನುಡಿಯನು ನುಡಿಸಿದಡೆ ಕೇಳನು.
ಕಡೆ ಮೊದಲ ಕಾರ್ಯ ಎಂತಪ್ಪುದೂ ಅಯ್ಯಾ ?

ಮೂಗರ ಮೂಗರ ಪ್ರಸಂಗದಂತೆ ಇದೆ
ಎನ್ನೊಳಗೆ ಅರಿವಿನ ಪರಿಮಳ !
ಹೊರಗೆ ನೋಡಿದಡೆ ಮುಗ್ಧವಾಯಿತ್ತು.
ಇದನೆಂತು ಉಪಮಿಸುವೆ ಅನಿಯಮದ ಬೆಡಗ ?
ಇದು ತನ್ನಿಂದ ತಾನಪ್ಪುದಲ್ಲದೆ, ಭಿನ್ನದಲುಂಟೆ ಗುಹೇಶ್ವರಾ ? ॥೫೮೫॥

೧೨೮೦

ನಡೆವಲ್ಲಿ, ನುಡಿವಲ್ಲಿ ಪ್ರಾಣಲಿಂಗವೆಂದೆಂಬರು,
ಕೆಡೆಯಲೊಡನೆ ಹೆಣನದು ಎಂಬರು, ಬೇಗ ಬಾರೆಂಬರು !
ಹಿರಿಯ ಭೂಮಿಯಲ್ಲಿ ನಿಮ್ಮ ಹೆಸರಿಲ್ಲ ಗುಹೇಶ್ವರಾ. ॥೫೮೬॥

೧೨೮೧

ನಟ್ಟಿರ್ದ ಬೆಟ್ಟಕ್ಕೆ ತಾಗು ತಡೆಯುಂಟೆ ಮರುಳೆ ?
ಆತುರದಲ್ಲಿ ಕಳವಳಿಸಿ, ವ್ಯಾಕುಳದಲ್ಲಿ ಕಳವಳಿಸುತಿಪ್ಪುದೀ ಮನವು.
ಆ ಮನವು ಬೆನ್ನುದೋರದ ಮೊದಲೆ ಘನವ ಬೆಂಬತ್ತಿ ಬಿಡದಿರಬಲ್ಲಡೆ
ತನ್ನಲ್ಲಿ ತ(ಚಿ?)ನ್ಮೂರ್ತಿ ಗುಹೇಶ್ವರನಯ್ಯಾ. ॥೫೮೭॥

೧೨೮೨

ನರರು ಸುರರು ಕಿನ್ನರರು ಮೊದಲಾದವರೆಲ್ಲರೂ
ಪಿಂಡವೆಂಬ ಭಾಂಡದಲ್ಲಿಯೆ ಅಡಗಿಹರಾಗಿ.
ನಾನವರ ರೂಹಿಸಿ ಬಲ್ಲೆನೆ ಅಯ್ಯಾ ?
ದೇವಗಣ ರುದ್ರಗಣ ಪ್ರಮಥಗಣ ಮೊದಲಾದವರೆಲ್ಲರೂ
ಬ್ರಹ್ಮಾಂಡವೆಂಬ ಭಾಂಡದಲ್ಲಿಯೆ ಅಡಗಿಹರಾಗಿ
ನಾನವರ ಭಾವಿಸಿ ಬಲ್ಲೆನೆ ಅಯ್ಯಾ ?
ಸತ್ಯರು ನಿತ್ಯರು ಮುಕ್ತರು ಮಹಾಮಹಿಮರೆಲ್ಲರು
ಚಿದ್ಬ್ರಹ್ಮಾಂಡವೆಂಬ ಭಾಂಡದಲ್ಲಿಯೆ ಅಡಗಿಹರಾಗಿ
ನಾನವರ ಅರಿದು ಬಲ್ಲೆನೆ ಅಯ್ಯಾ ?
ಇಂತೀ ತ್ರಿಭಾಂಡವನೊಳಕೊಂಡ ಅಖಂಡಿತ ಪರಿಪೂರ್ಣವಪ್ಪ ಭಾಂಡವೆ,
ತನ್ನ ಇರವೆಂದರಿದ ನಿಜಲಿಂಗೈಕ್ಯನ–ಉಪಮಿಸಲಿಲ್ಲ.
ಉಪಮಿಸಲಿಲ್ಲಾಗಿ ರೂಹಿಸಲಿಲ್ಲ. ರೂಹಿಸಲಿಲ್ಲಾಗಿ ಭಾವಿಸಲಿಲ್ಲ.
ಭಾವಿಸಲಿಲ್ಲಾಗಿ ಅರಿಯಲಿಲ್ಲ !
ಅರಿಯಲಿಲ್ಲದ ಅರಿವೆ ತಾನಾಗಿ, ಗುಹೇಶ್ವರನೆಂಬುದು ಬೇರಿಲ್ಲ. ॥೫೮೮॥

೧೨೮೩

ನರಲೋಕದ ನರರುಗಳೆಲ್ಲರು ನರಸಂಸಾರಕ್ಕೊಳಗಾದರು.
ಸುರಲೋಕದ ಸುರರುಗಳೆಲ್ಲರು ಸುರಸಂಸಾರಕ್ಕೊಳಗಾದರು.
ಮುನಿಲೋಕದ ಮುನಿಗಳೆಲ್ಲರು ತಪಃಸಂಸಾರಕ್ಕೊಳಗಾದರು.
ರುದ್ರಲೋಕದ ರುದ್ರಗಣಂಗಳೆಲ್ಲರು ರುದ್ರಪದವೆಂಬ ಸಂಸಾರಕ್ಕೊಳಗಾದರು.
ಲಿಂಗವ ಧರಿಸಿದವರೆಲ್ಲರು ಲಿಂಗಸಂಸಾರಕ್ಕೊಳಗಾದರು.
ಜಂಗಮವ ಪೂಜಿಸಿದವರೆಲ್ಲರು ಸಾಯುಜ್ಯ ಸಂಸಾರಕ್ಕೊಳಗಾದರು.
ಪ್ರಸಾದ ಪಾದೋದಕ ಸಂಬಂಧಿಗಳೆಲ್ಲರು ಪ್ರಸಾದ ಸಂಸಾರಕ್ಕೊಳಗಾದರು.
ಗುಹೇಶ್ವರಲಿಂಗದಲ್ಲಿ ಸರ್ವ ಸಂಸಾರವಿರಹಿತ ಚನ್ನಬಸವಣ್ಣಂಗೆ,
ನಮೋ ನಮೋ ಎಂಬೆನು. ॥೫೮೯॥

೧೨೮೪

ನವಖಂಡಪೃಥ್ವಿ, ಚತುರ್ದಶಭುವನಗ್ರಾಮದಿಂದತ್ತತ್ತ ಮುನ್ನ ಅನಾದಿಯಲ್ಲಿ,
ಜಂಗಮವೆ ಲಿಂಗವೆಂಬಿರಿ.
ಇದೇನಿ ಭೋ, ಎಡೆಯಲ್ಲಿ ಕೊಲೆಯಾಯಿತ್ತು !
ಭಕ್ತಿ ಹಿಂದುಮುಂದಾಯಿತ್ತು, ರಕ್ಕಸರ ಪರಿಯಾಯಿತ್ತು !
ಇದ ಕಂಡು ಬೆರಗಾದೆ ಗುಹೇಶ್ವರಾ ! ॥೫೯೦॥

೧೨೮೫

ನವನಾಳ ಬಿಂದು ಪವನ ಹೃದಯಕಮಲ ಮಧ್ಯದ ದಳವ ಮೆಟ್ಟಿ,
ಗಳಿಗೆ ಗಳಿಗೆಗೆ ಚರಿಸುವ ಪರಮಹಂಸನ
ಅರಿಗೆಯೂ ಅರಿಯಬಾರದು – ಘಮ್ಮುಘಮ್ಮನೆ ಸುತ್ತುವನಲ್ಲದೆ !
ಅದೆಂತೆಂದಡೆ:
"ಪೂರ್ವದಲೇ ಭವೇತ್ ಭಕ್ತಿರಾಗ್ನೇಯಾಂ ಚ ಕ್ಷುಧೈವ ಚ ॥
ದಕ್ಷಿಣೇ ಕ್ರೋಧಮುತ್ಪನ್ನಂ ನೈರುತ್ಯಾಂ ಸತ್ಯಮೇವ ಚ ।
ಪಶ್ಚಿಮೇ ತು ಭವೇತ್ ನಿದ್ರಾ ವಾಯವ್ಯಾಂ ಗಮನಸ್ತಥಾ ।
ಉತ್ತರಾಯಾಂ ಧರ್ಮಶೀಲಾವೈಶಾನ್ಯಾಂ ವಿಷಯಸ್ತಥಾ ॥
ಅಷ್ಟದಲೇಷು ಮಧ್ಯಸ್ಥಮಾನಚಂದಮಚಲಂ ಶಿವಃ – ಎಂದುದಾಗಿ
ಇಂದು ಅಷ್ಟದಳವ ಮೆಟ್ಟಿ ಚರಿಸುವ ಆ ಪರಮಹಂಸನ
ತಲೆಗಿಂಬ ಮಾಡಿ ನಿಲಿಸಬಲ್ಲ ನಿಮ್ಮ ಶರಣ ಚನ್ನಬಸವಣ್ಣಂಗೆ
ನಾನು ನಮೋ ನಮೋ ಎಂಬೆನು ಗುಹೇಶ್ವರಾ. ॥೫೯೧॥

೧೨೮೬

ನವಿರೂ ನೆಳಲೂ ಇಲ್ಲದಂದು. ಷಡುಶೈವರಿಲ್ಲದಂದು
ಬ್ರಹ್ಮಾಂಡ ಭಾಂಡ ಭಾಂಡಾವಳಿಗಳಿಲ್ಲದಂದು
ಪಿಂಡಾಂಡ ಅಂಡ ಪಿಂಡಾವಳಿಗಳಿಲ್ಲದಂದು
ಅಖಂಡಿತ ಜ್ಯೋತಿರ್ಮಯಲಿಂಗ !
ಶರಣನ ಲೀಲೆಯಿಂದಾದ ಏಳು ತೆರದ ಗಣ[ಘನ?] ಪಿಂಡವಂ ಕಂಡು
ಅಖಂಡಿತನಾಗಿ ಬದುಕಿದೆನಯ್ಯಾ ಗುಹೇಶ್ವರಾ. ॥೫೨॥

೧೨೮೭ಅ

ನಾದಬಿಂದುವಿನೊಳಗಣ ಪದ್ಮಾಸನದ ಮೇಲೆ ಕುಳ್ಳಿರ್ದು,
ಗಳಿಗೆಗೊಮ್ಮೆ ಸುಳಿದು ಹೋದ ಕಳ್ಳನನಾರಯ್ಯಾ ಬಲ್ಲವರು ?
ಹಾರುವ ಹಂಸೆಯ ತಲೆಗಿಂಬು ಮಾಡಿದವರ
ಬಸವಣ್ಣ ಬಲ್ಲ ಕಾಣಾ ಗುಹೇಶ್ವರ. ॥೫೩॥

೧೨೮೮

ನಾನೀನೆಂಬ ಭಾವವಾರಿಂದಾಯಿತ್ತು ಹೇಳಾ ?
ನೀನೆಂಬುದೆ ಅಜ್ಞಾನ, ನಾನೆಂಬುದೆ ಮಾಯಾಧೀನ.
ನೀನೆನ್ನದೆ ನಾನೆನ್ನದೆ ಇಪ್ಪ ಸುಖವ, ಭಿನ್ನವಿಲ್ಲದೆ ಅರಿಯಬಲ್ಲಡೆ
ಆ ಸುಖ ನಿಮಗರ್ಪಿತ ಕಾಣಾ ಗುಹೇಶ್ವರಾ. ॥೫೪॥

೧೨೮೯

ನಾನು ಗುರುಲಿಂಗಜಂಗಮದಲ್ಲಿ ನಿಷ್ಠೆವಿಡಿದು
ಬೇಡಿಕೊಂಡು ಬದುಕಿದೆನಯ್ಯಾ.
ನಾನು ಪಾದೋದಕ ಪ್ರಸಾದದಲ್ಲಿ ನಿಷ್ಠೆವಿಡಿದು
ಬೇಡಿಕೊಂಡು ಬದುಕಿದೆನಯ್ಯಾ.
ನಾನು ಮೂರು ಪ್ರಣವಗಳಲ್ಲಿ ನಿಷ್ಠೆವಿಡಿದು
ಬೇಡಿಕೊಂಡು ಬದುಕಿದೆನಯ್ಯಾ.
ನಾನು ಪುರಾತನರ ಮೇಲುಪಂಕ್ತಿಗಳಲ್ಲಿ ನಿಷ್ಠೆವಿಡಿದು
ಬೇಡಿಕೊಂಡು ಬದುಕಿದೆನಯ್ಯಾ.

ನಾನು ಶರಣರುಗಳಲ್ಲಿ ನಿಷ್ಠೆವಿಡಿದು.
ಬೇಡಿ ಹಾಡಿ ಹೊಗಳಿ ಐದು ಬಗೆಯ ಜಪವ ಜಪಿಸಿ
ಬೇಡಿಕೊಂಡು ಬದುಕಿದೆನಯ್ಯಾ.
ಗುಹೇಶ್ವರಾ ನಿಮ್ಮ ಶರಣ ಬಸವಣ್ಣನ ಸನ್ನಿಧಿಯಿಂದ
ನಾನು ಕೃತಾರ್ಥನಾದೆನಯ್ಯಾ. ॥೫೯೫॥

೧೨೯೦

ನಾನೆಂಬ ಅಹಂಕಾರ ತಲೆದೋರಿದಲ್ಲಿ
ಅಟಮಟ ಕುಟಿಲ ಕುಹಕವೆಂಬ ಬಿರುಗಾಳಿ ಹುಟ್ಟಿತ್ತು.
ಆ ಬಿರುಗಾಳಿ ಹುಟ್ಟಲೊಡನೆ ಜ್ಞಾನಜ್ಯೋತಿ ಕೆಟ್ಟಿತ್ತು.
ಜ್ಞಾನಜ್ಯೋತಿ ಕೆಡಲೊಡನೆ.
ನಾ ಬಲ್ಲೆ,–ಬಲ್ಲಿದರೆಂಬ ಅರುಹಿರಿಯರೆಲ್ಲರು
ತಾಮಸಕ್ಕೊಳಗಾಗಿ ಸೀಮೆದಪ್ಪಿ ಕೆಟ್ಟರು ಕಾಣಾ ಗುಹೇಶ್ವರಾ. ॥೫೯೬॥

೧೨೯೧

ನಾನೆಂಬ ಅಹಂಕಾರದಲ್ಲಿ ನಾನುಂಡೆನಾದಡೆ,
ಎನಗದೆ ಭಂಗ.
ಸ್ತುತಿ–ನಿಂದೆಗೆ ನೊಂದೆನಾದಡೆ
ಅಂಗೈಯಲ್ಲಿರ್ದ ಗುಹೇಶ್ವರಲಿಂಗಕ್ಕೆ ದೂರ ಕಾಣಾ
ಸಂಗನಬಸವಣ್ಣಾ. ॥೫೯೭॥

೧೨೯೨

ನಾನೆಂಬುದು ಪ್ರಮಾಣ. ನೀನೆಂಬುದು ಪ್ರಮಾಣ.
ಸ್ವಯವೆಂಬುದು ಪ್ರಮಾಣ. ಪರವೆಂಬುದು ಪ್ರಮಾಣ.
ಪ್ರಮಾಣವೆಂಬುದು ಪ್ರಮಾಣ.
ಗುಹೇಶ್ವರನೆಂಬುದು ಅಪ್ರಮಾಣ ! ॥೫೯೮॥

೧೨೯೩

ನಾ ಸತ್ತೆನೆಂದು ಕೂಗಿದುದುಂಟೆ ?
ಬೈಚಿಟ್ಟ ಬಯಕೆ ಕರೆದುದುಂಟೆ ?
ಹೆಪ್ಪಿಟ್ಟ ಹಾಲು ಸಿಹಿಯಪ್ಪುದೆ ?
ಈ ಮಾತು ಒಪ್ಪವಲ್ಲ ಗುಹೇಶ್ವರಲಿಂಗಕ್ಕೆ. ॥೫೯೯॥

೧೨೯೪

ನಿಂದಡೆ: ಹೊನ್ನು ಹೆಣ್ಣು ಮಣ್ಣು ಹಿಡಿದು
ನೆಟ್ಟನೆ ಭಕ್ತನಾಗಿ ನಿಲ್ಲಬೇಕು.
ಸುಳಿದಡೆ: ಹೊನ್ನು ಹೆಣ್ಣು ಮಣ್ಣು ಬಿಟ್ಟು
ನೆಟ್ಟನೆ ಜಂಗಮವಾಗಿ ಸುಳಿಯಬೇಕು.
ನಿಂದು ಭಕ್ತನಲ್ಲದ, ಸುಳಿದು ಜಂಗಮವಲ್ಲದ
ಉಭಯಭ್ರಷ್ಟರನೇನೆಂಬೆ ಗುಹೇಶ್ವರಯ್ಯಾ ? ॥೬೦೦॥

೧೨೯೫

ನಿಂದೆ. ಎಂಬುದು ಬಂದ ಭವದಲ್ಲಿಯೆ ಹೋಯಿತ್ತು.
ಮುಂದೆ ಗುರುಕಾರುಣ್ಯವಾದಲ್ಲಿಯೇ 'ಹಿಂದು' ಹರಿಯಿತ್ತು.
ಮರ್ತ್ಯಲೋಕದ ಮಹಾಗಣಂಗಳು ಮೆಚ್ಚಿ, ದಾಸೋಹವ ಮಾಡಿದಲ್ಲಿಯೆ
ಪ್ರಮಥಗಣಂಗಳು ತಮ್ಮೊಳಗೆ ನಿಮ್ಮನು ಇಂಬಿಟ್ಟುಕೊಂಡು.
ಅಂಗದ ಮೇಲೆ ಲಿಂಗವುಳ್ಳುದೆಲ್ಲವೂ ಸಂಗಮನಾಥನೆಂದರಿದು.
ನಿನ್ನ ಸರ್ವಾಂಗದಲ್ಲಿ ಲಿಂಗಸನ್ನಹಿತವಾದಲ್ಲಿಯೆ
ಪ್ರಾಣಲಿಂಗಸಂಬಂಧವಳವಟ್ಟಿತ್ತು.
ಲಕ್ಷದ ಮೇಲೆ ತೊಂಬತ್ತಾರುಸಾವಿರ ಪ್ರಮಥರಿಗೆ ಮಾಡಿದ ಸಯದಾನವ
ನಿಮ್ಮ ಲಿಂಗಕ್ಕೆ ಆರೋಗಿಸಲಿತ್ತು ತೃಪ್ತಿಪಡಿಸಿದಲ್ಲಿಯೆ
ನಿನ್ನ ತನು ಮನ ಪ್ರಾಣಗಳು ಅರ್ಪಿತವಾದಲ್ಲಿ
ಮಹಾಪ್ರಸಾದ ಸಾಧ್ಯವಾಯಿತ್ತು.
ಆದಿಯ ಲಿಂಗವಿಡಿದು ನಾನು ನಿಮ್ಮಲ್ಲಿ ಅಡಗಿದ ಬಳಿಕ
ಹಿಂದಣ ಸಂಕಲ್ಪವಳಿಯಿತ್ತು.
ಸರ್ವಾಚಾರಸಂಪತ್ತು ನಿನ್ನಲ್ಲಿ ಸಯವಾದಲ್ಲಿ
ಸರ್ವಸೂತಕ ತೊಡೆಯಿತ್ತು.
ಗುಹೇಶ್ವರಲಿಂಗವು ನಿನ್ನ ಹೃದಯಕಮಲದಲ್ಲಿ ನೆಲೆಗೊಂಡು
ನಿನ್ನ ಕರಸ್ಥಲದೊಳಗೆ ತೊಳಗಿ ಬೆಳಗುತ್ತೈದಾನೆ.
ಇನ್ನೊಮ್ಮೆ ತಿಳಿದು ನೋಡಾ ಸಂಗನಬಸವಣ್ಣಾ. ॥೬೦೧॥

೧೨೯೬

ನಿಜ ಬಲ್ಲವಂಗೆ ಜಲವೂ ಸರಿ. ನೆಲವೂ ಸರಿ.
ಅರಿದು ನುಡಿವಂಗೆ ಜಗವೂ ಸರಿ. ಸಮಯವೂ ಸರಿ.
ಎಮಗಾಮಿಥ್ಯವಿಲ್ಲ. ಸಂಗನಬಸವಣ್ಣಾ.
ಗುಹೇಶ್ವರಲಿಂಗವು ಪರಿಪೂರ್ಣವಾದ ಕಾರಣ. ॥೬೦೨॥

೧೨೯೭

ನಿಜವರಿಯದ (ನಿಜವರಿದ?) ಶರಣಂಗೆ ಆಚಾರವಿಲ್ಲ,
ಆಚಾರವಿಲ್ಲದವಂಗೆ ಲಿಂಗವಿಲ್ಲ.
ಲಿಂಗವಿಲ್ಲದ ಶರಣನ ಸುಳುಹು ಜಗದಲ್ಲಿ ಸುಳಿವು,
ಹೊರವೇಷದ ಜಂಗಮಕ್ಕೆ ವಿಪರೀತ ಚರಿತ್ರವದು
ಸರ್ವರಿಗೆ ಪ್ರಕಟವಲ್ಲ ನೋಡಾ !
ಸಂಸಾರಿಗಳು ಬಳಸುವ ಬಳಕೆಯನೆಂದೂ ಹೊದ್ದನು.
ಇದನರಿಯದೆ ಸಟೆಯ ಹಿಡಿದು ದಿಟವಮರದು
ಇಲ್ಲದ ಲಿಂಗವನುಂಟೆಂದು ಪೂಜಿಸುವರಾಗಿ ಆಚಾರವುಂಟು,
ಆಚಾರವುಳ್ಳವಂಗೆ ಗುರುವುಂಟು,
ಗುರುವುಳ್ಳವಂಗೆ ಲಿಂಗವುಂಟು,
ಲಿಂಗಪೂಜಕರಿಗೆ ಭೋಗವುಂಟು.
ಈ ಬರಿವಾಯ ಮಂಜಕ(ವಂಚಕ ?)ರೆಲ್ಲರೂ ಪೂಜಕರಾದರು.
ಗುಹೇಶ್ವರಲಿಂಗವು ಅಲ್ಲಿ ಇಲ್ಲವೆಂಬುದನು
ಈ ವೇಷಲಾಂಛನರೆತ್ತ ಬಲ್ಲರು ಹೇಳಯ್ಯ ಸಂಗನಬಸವಣ್ಣಾ. ॥೬೦೩॥

೧೨೯೮

ನಿತ್ಯನಿರಂಜನ ನಿರವಯಖಂಡ ಪರವಸ್ತುವಿನತ್ತಣಿಂದುದಯಿಸಿ,
ನಿಂದ ನಿಲವನರಿದು ಭಕ್ತ,
ಗುರುಪ್ರಸನ್ನವಿಡಿದು ಮಾಹೇಶ್ವರ,
ಲಿಂಗಪೂಜೆಯವಿಡಿದು ಪ್ರಸಾದಿ,
ಸ್ವಾನುಭಾವ ವಿವೇಕವಿಡಿದು ಪ್ರಾಣಲಿಂಗಿ,
ಸ್ವಯಾನಂದವಿಡಿದು ಶರಣ,–
ಸೋಹಂ ಬ್ರಹ್ಮಾಸ್ಮಿನ್ನೆಂದು ಲಿಂಗೈಕ್ಯ.
ಇಂತೀ ಷಟ್ಸ್ಥಲ ಸಂಪನ್ನನಾಗಿ, ನಿಂದ ನಿಲವ ನೀ ಬಲ್ಲೆಯಲ್ಲದೆ
ಲೋಕದ ಸಂದೇಹಿಮಾನವರೆತ್ತ ಬಲ್ಲರು ಗುಹೇಶ್ವರಾ. ॥೬೦೪॥

೧೨೯೯

ನಿದ್ರೆಯಿದ್ದಡೆಯಲ್ಲಿ ಬುದ್ಧಿಯೆಂಬುದಿಲ್ಲ ನೋಡಾ.
ಕಾಯವೊಂದೆಸೆ, ಜೀವವೊಂದೆಸೆ,
ಗುಹೇಶ್ವರಲಿಂಗ ತಾನೊಂದೆಸೆ ! ॥೬೦೫॥

೧೩೦೦

ನಿಧಾನವ ಸಾಧಿಸಿದವರಿಗೆ ವಿಗುರ್ಬಣೆ ಕಾಡುವುದು.
ಅದಕ್ಕಂಜಲಾಗದು ಬೆಚ್ಚಲಾಗದು ಬೆದರಲಾಗದು.
ಹೊನ್ನು ಹೆಣ್ಣು ಮಣ್ಣು ಈ ತ್ರಿವಿಧಮಾಯವ ತೋರಿ, ಹೆರತೆಗೆಸುವನಾಗಿ !
ಸತಿಪುರುಷಸಂಯೋಗದ ವೇಳೆಯಲ್ಲಿ
ಜೀವಧನ ಬಿಟ್ಟುಕೊಂಡು ಮಡಕೆಯನೂಕುವುದು.
ಇದಿರ ಜೀವಧನ ಬಿಟ್ಟುಕೊಂಡು ಮನೆಯ ಹಿಂದನುಚ್ಚುವುದು.
ಬೆಕ್ಕು ನೆಲಹಿಗೆ ತುಡುಕುವುದು. ನಾಯಿ ಮನೆಯ ಹೊರಗ ಹೊಂಚಿಕೊಂಡಿಹುದು.
ಮಗುವು ಮೊಲೆಗೆ ಅಳುವುದ ಕೇಳಿ–
ಇವೆಲ್ಲವ ಸಂತವಿಟ್ಟು ಬಂದು ಪುರುಷನ ನೆರೆವಳು,
[ಇದು] ಸಜ್ಜನಸ್ತ್ರೀಯ ಲಕ್ಷಣವು !
ಇಂತಪ್ಪ ಆ ತವಕ ನಿನಗಳವಟ್ಟಿತ್ತು ಬಸವಾ
ಆ ಗುಹೇಶ್ವರನ ಸಂಯೋಗದ ವೇಳೆಯಲ್ಲಿ ! ॥೬೦೯॥

೧೩೦೧

ನಿನ್ನ ನೊಸಲಲ್ಲಿ ಕಣ್ಣು, ಮನದಲ್ಲಿ ವಿರಸ, ನುಡಿವುದೆಲ್ಲವೂ ಭಕ್ತಿರಸ !
ಜ್ಞಾನವೆಂತು ಹೇಳಾ ? ನಿರಹಂಕಾರವೆಂತು ಹೇಳಾ ?
ಅರುಹಿನ ಕುರುಹಿನ ಮರವೆ ಮಾತಿನೊಳಗದೆ
ನಿನ್ನಿಂದ ನಿಜಪದವೆಂತು ಸಾಧ್ಯವಪ್ಪುದು ಹೇಳಾ ?
ಕುರುಹಳಿದು ಕುರುಹನರಿಯ ಬಲ್ಲಡೆ
ಗುಹೇಶ್ವರ ಲಿಂಗದಲ್ಲಿ ಉಭಯಗೆಟ್ಟಲ್ಲದೆ ಪ್ರಸಾದವಿಲ್ಲ,
ಕಾಣಾ ಮಡಿವಾಳ ಮಾಚಯ್ಯಾ. ॥೬೦೭॥

೧೩೦೨

ನಿಮ್ಮ ತೇಜವ ನೋಡಲೆಂದು ಹೆರಸಾರಿ ನೋಡುತ್ತಿರಲು
ಶತಕೋಟಿ ಸೂರ್ಯರು ಮೂಡಿದಂತೆ ಇರ್ದುದಯ್ಯಾ !
ಮಿಂಚಿನಬಳ್ಳಿಯ ಸಂಚವ ಕಂಡಡೆ,
ಎನಗಿದು ಸೋಜಿಗವಾಯಿತ್ತು !
ಗುಹೇಶ್ವರಾ ನೀನು ಜ್ಯೋತಿರ್ಲಿಂಗವಾದಡೆ
ಉಪಮಿಸಿ ನೋಡಬಲ್ಲವರಿಲ್ಲಯ್ಯಾ. ॥೬೦೮॥

೧೩೦೩

ನಿಮ್ಮ ನೋಡುವ ಸುಖ ಉಳ್ಳನ್ನಕ್ಕರ, ಬೆರಸಲೆಲ್ಲಿಯದಯ್ಯಾ ?
ನಿಮ್ಮ ಬೆರಸುವ ತವಕ ಉಳ್ಳನ್ನಕ್ಕ ನೋಟ ಹಿಂಗದು !
ನೋಡಿ ಕೂಡಿ ಸ್ವೈವೆರಗಾದ ಸುಖವನು
ಏನೆಂದುಪಮಿಸುವೆನಯ್ಯಾ ಗುಹೇಶ್ವರಾ ? ॥೬೦೯॥

೧೩೦೪

ನಿಮ್ಮ ಲೀಲೆ, ನಿಮ್ಮ ವಿನೋದ, ನಿಮ್ಮ ಹರೆ, ನಿಮ್ಮ ಕೊಳಲು,
ಆನಿದಕ್ಕೆ ಬೇಕೆನ್ನೆ ಬೇಡೆನ್ನೆ.
ಮೇಘವಹ್ನಿ ಧರೆಗೆರಗುತ್ತ ಭೂಲೋಕವ ಬೆಸಗೊಂಡಿತ್ತೆ ?
ಉದರಾಗ್ನಿ ಧರೆಗೆರಗುತ್ತ ಭೂತಂಗಳ ಬೆಸಗೊಂಡಿತ್ತೆ ?
ಗುಹೇಶ್ವರ ಅಲ್ಲಮನ ನಿರುಪಮ ಮಹಿಮೆ ಎಂತಿದ್ದಿತ್ತು
ಆ ಹಾಂಗೆ ನೀನು ಮಾಡುವುದಲ್ಲದೆ
ನಾನಿದಕ್ಕೆ ಬೇಕೆನ್ನೆನು ಬೇಡೆನ್ನೆನು. ॥೬೧೦॥

೧೩೦೫

ನಿಮ್ಮಲ್ಲಿ ಭಕ್ತಿಯುಂಟು, ತಮ್ಮಲ್ಲಿ ಭಕ್ತಿಯುಂಟು
ಎಮ್ಮಲ್ಲಿ ಭಕ್ತಿಯುಂಟು ಎಂದಡೆ ಶಿವಶರಣರು ಮೆಚ್ಚುವರೆ ?
ಹೂಸಿ ಹುಂಡನೆ ಮಾಡಿ ಬಾಯ ಸವಿಯ ನುಡಿವರೆಲ್ಲಾ ಭಕ್ತರಪ್ಪರೆ ?
ಮಾತಿನ ಅದ್ವೈತವ ಕಲಿತು ಮಾರುಗೋಲ ಬಿಡುವರೆಲ್ಲ ಭಕ್ತರಪ್ಪರೆ ?
ಬೆಳ್ಳಿಗೆಯ ಮಕ್ಕಳೆಂದಡೆ ಬಳ್ಳವಾಲ ಕರೆವವೆ ಮರುಳೆ ?
ಸಂಗನಬಸವಣ್ಣನೆಂದರೆ ಮಾತಿನ ಮಾತಿಂಗೆಲ್ಲ ಭಕ್ತಿಯುಂಟೆ ?
ಬಂದ ಜಂಗಮದ ಇಂಗಿತಾಕಾರವನರಿದು, ಇದಿರೆದ್ದು ವಂದಿಸಿ,
ಕೈಮುಗಿದು ನಡುನಡುಗಿ ಕಿಂಕಿಲನಾಗಿ,
ಭಯಭೀತಿ ಭೃತ್ಯಾಚಾರವಾಗಿ ಇರಬಲ್ಲಡೆ ಅದು ಭಕ್ತಿ, ಅದು ವರ್ಮ !
ಬಂದವರಾರೆಂದರಿಯದೆ, ನಿಂದ ನಿಲವರಿಯದೆ
ಕೆಮ್ಮನೆ ಅಹಂಕಾರವ ಹೊತ್ತುಕೊಂಡಿಪ್ಪವರ
ನಮ್ಮ ಗುಹೇಶ್ವರಲಿಂಗನೊಲ್ಲ ನೋಡಾ ! ॥೬೧೧॥

೧೩೦೬

ನಿಮ್ಮಲ್ಲಿ ಸನ್ನಹಿತನಾಗಿ ನಿಜವನರಿತು ಬೆರಸಿದ
ಶಿವಯೋಗಿಯ ಕಂಡಡೆ ಎನ್ನ ಮನ ಅಗಲಲಾರದಯ್ಯಾ;
ಎನ್ನ ತನು ಅಪ್ಪದಿರಲಾರದಯ್ಯಾ.

ಎನ್ನ ಶಬುದ ಹೊಗಳಿದಲ್ಲದೆ ಸೈರಿಸಲಾರದಯ್ಯಾ.
ಗುಹೇಶ್ವರಾ ನಿಮ್ಮ ಶರಣ ಸಿದ್ಧರಾಮಯ್ಯನನಪ್ಪಿ
ಸೊಪ್ಪಳಿದು ನಮೋ ನಮೋ ಎನುತಿರ್ದೆನು. ||೬೧೨||

೧೩೦೭

ನಿಮ್ಮ ಶಕ್ತಿ ಜಗದೊಳಗಿಪ್ಪುದು, ಜಗದ ಶಕ್ತಿ ನಿಮ್ಮೊಳಗಿಪ್ಪುದು.
ಜಗಕ್ಕೆ ನಿಮಗೆ ಭೇದವಾದುದಕ್ಕೆ ಬೆರಗಾದೆನು !
ಅಂದೊಮ್ಮೆ ತ್ರಿಪುರವ ಸುಟ್ಟಲ್ಲಿ ನಾಚಿತ್ತೆನ್ನ ಮನವು.
ಕಾಮನನುರುಹಿ ಕಾಮಹರನೆನಿಸಿಕೊಂಡಡೆ
ನಿನ್ನ ಅಹಂಕಾರವ ನೋಡಿ ಹೇಸಿತ್ತೆನ್ನ ಮನವು.
ಕಾಲನ ಸುಟ್ಟು ಬೊಟ್ಟನಿಟ್ಟಡೆ ನಗೆಗೆಡೆಯಾಯಿತ್ತು ನಿಮ್ಮ ಘನವೆನಗೆ.
ಗುಹೇಶ್ವರಾ, ನೀ ಮುನಿದು ನೊಸಲಕಣ್ಣ ತೆಗೆದಡೆ
ಎನ್ನ ಅಂಗಾಲೊಳಡಗಿತ್ತಯ್ಯಾ ನಿಮ್ಮ ಕೋಪ. ||೬೧೩||

೧೩೦೮

ನಿರಾಳ ನಿಶ್ಶೂನ್ಯ ಪರಮಜಂಗಮದರಿವು ತಾನಾಗದೆ.
ಬರಿದೆ ಅಹಂಕಾರದಿಂದ ಮೂರು ಮಲಂಗಳ ಸ್ವೀಕರಿಸುತ್ತ
ನಾವೆ ಜಂಗಮವೆಂದು ನುಡಿವ ಕರ್ಮ ಪಾಷಂಡಿಗಳು –
ಕಾಶಿ ಕೇದಾರ ಶ್ರೀಶೈಲ ವಿರೂಪಾಕ್ಷನೆಂದು.
ಮತ್ತೆ ಈರಣ್ಣ ಮಲ್ಲಣ್ಣ ಬಸವಣ್ಣ ಇವರೇ ದೇವರೆಂದು
ಆ ಕಲ್ಲುಗಳ ತಮ್ಮ ಮನೆಯೊಳಗೊಂದು ಮೂಲೆ
ಸಂದಿ ಗೊಂದಿ ಗೂಡಿನೊಳಗಿಟ್ಟು
ಅದರ ಬಳಿದ [ತೊಳೆದ?] ನೀರು. ಅವರೆಂಜಲ ತಿಂಬುವ ಪಶುಗಳಿಗೆ
ದೇವಭಕ್ತರೆನಬಹುದೇನಯ್ಯಾ ? ಎನಲಾಗದು.
ಇಂತಪ್ಪ ಅನಾಚಾರಿ ಅಪಸ್ಮಾರಿ ಶ್ವಪಚರ
ಜಂಗಮವೆಂದು ಪೂಜಿಸಲಾಗದು ಕಾಣಿರೊ.
ವೀರಶೈವ ಆಚಾರವುಳ್ಳ ಭಕ್ತನು ಇದ ಮೀರಿ ಪೂಜಿಸಿದಡೆ
ಅವರಿಬ್ಬರಿಗೆಯೂ ಭವಕರ್ಮಂಗಳು ತಪ್ಪವು ಕಾಣಾ ಗುಹೇಶ್ವರಾ. ||೬೧೪||

೧೩೦೯

ನಿರ್ವಿಕಲ್ಪಿತದ ಅದ್ವೈತವ ನೋಡಿರೆ !
ಬೆಳಗಿನೊಳಗಣ ಬೆಳಗು ಅಡಗಿತ್ತು ನೋಡಿರೆ !
ಚಂದ್ರ ಸೂರ್ಯರು ಭೂಲೋಕದೊಳು ಅಂದು ಅದಾರುವ ಕಾಣೆ !

ಜ್ಯೋತಿಯಿಲ್ಲದ ಬೆಳಗಿನ ಪ್ರಭೆಯೊ,
ಗುಹೇಶ್ವರಲಿಂಗದಲ್ಲಿ ಸಿದ್ಧರಾಮಯ್ಯದೇವರ ಮಹಾಘನವು ! ||೬೧೫||

೧೩೧೦

ನಿಶ್ಚಲವೆಂಬ ಭಾಜನದಲ್ಲಿ ನಿಜಜ್ಞಾನವೆಂಬ ಅಕ್ಕಿಯ ತುಂಬಿ,
ಪರಮಾನಂದವೆಂಬ ಜಲವನೆರೆದು,
ಸ್ವಯಂ ಪ್ರಕಾಶವೆಂಬ ಅಗ್ನಿಯಿಂದ ಪಾಕವಾದ ಲಿಂಗದೋಗರವು
ಮಹಾಘನದಲ್ಲಿ ನಿಂದು ಘನತೃಪ್ತಿಯನೀವುತ್ತಿದ್ದಿತ್ತು ಕಾಣಿರೆ !
ಅದ ಕಣ್ಣಿಲ್ಲದೆ ಕಂಡು ಕೈಯಿಲ್ಲದ ಕೊಂಡು
ಬಾಯಿಲ್ಲದೆ ಉಂಡ ತೃಪ್ತಿಯ, ಅರಿವಿಲ್ಲದ ಅರಿವಿನಿಂದ ಅರಿದು,
ಸುಖಿಯಾದೆ ನಾನು ಗುಹೇಶ್ವರಾ. ||೬೧೬||

೧೩೧೧

ನಿಷ್ಠೆ ಘಟಿಸಿ ಕ್ರಿಯವಗ್ರಹಿಸಿ ಭಾವಭರಿತವಾಗಿ
ಜ್ಞಾನವೆ ಅಂಗವಾಗಿ ಕ್ರಿಯೆ ಪ್ರಾಣವಾಗಿ,
ಮತ್ತೆ ಜ್ಞಾನವೆ ಪ್ರಾಣವಾಗಿ ಕ್ರಿಯೆ ಅಂಗವಾಗಿ
ಅಂಗಮನಕ್ರಿಭಾವ ಈ ಚತುರ್ವಿಧವೊಂದಾಗಿ,
ಮತ್ತೆ ನಿಷ್ಠೆಘಟಿಸಿ ಕ್ರಿಜ್ಞಾನ ಎರಡ ಮೀರಿನಿಂದ ಭಕ್ತವಿರಕ್ತನ
ತೂರ್ಯದ ಕ್ರಿಯೆ ವೇಧಿಸಿ ನಿಂದವನ ನಿಲವು ಎಂತುಟೆಂದರೆ:
ಕ್ರಿಯೆಂದರೆ ಇಷ್ಟಲಿಂಗ, ಅಂಗವೆಂದರೆ ಪ್ರಾಣಲಿಂಗ.
ಆ ಪ್ರಾಣಲಿಂಗವ ಇಷ್ಟಲಿಂಗದಲ್ಲಡಗಿಸಿಕೊಂಡು ನಿಂದುದು ಎರಡಾಗಿ
ಭಕ್ತನೆಂದು ಮಾಹೇಶ್ವರನೆಂದು ನಿಷ್ಠೆಯಲ್ಲಿ ನೆರೆನಿಂದಿರಲು
ಮತ್ತಾ ನಿಷ್ಠೆಪಸರಿಸಿ ಆ ಭಕ್ತಮಾಹೇಶ್ವರರು
ತಮ್ಮ ಮುನ್ನಿನ ನಿಷ್ಠೆಯ ಬಳಿಗೆ ಬಂದು
ಎನ್ನಕ್ರಿ ನಿಮ್ಮಲ್ಲಿಯೇ ಅಡಗಿತ್ತು ಆ ಮುಕ್ತತ್ವದ ಕ್ರಿಯೊಳಗೊಂಡು
ದೃಷ್ಟವ ಕಂಡು ಬರ....ಕೇಳಲಾಗಿ,
ಎನ್ನ ಇಷ್ಟವಾಸರಿಸಿತ್ತೆಂದು ಹೇಳಲು
ಸುಮ್ಮನೆ ಅವನ ಕೂಡೆ ಪ್ರಸಂಗಿಸಲಾಗದು.
ಅದೇನು ಕಾರಣವೆಂದರೆ:
ಮೊಟ್ಟ ಮೊದಲಲ್ಲಿ ಮೂರು ಭಿನ್ನವ ಕೇಳುವದು
ಆ ಮೂರು ಭಿನ್ನಯೆಂತಾದವಯ್ಯಯೆಂದರೆ,
ಅದರೊಳಗೈದು ಭಿನ್ನ ಉಂಟು.

ಇಂತೀ ಎಂಟರೊಳಗೆ ನಾಲ್ಕು ಲಿಂಗದ ನೆಲೆ ಸಿಕ್ಕಿದರೆ ಅವೆಲ್ಲರಲ್ಲಿ ಬಂಧಿಸೂದು.
ಅದಲ್ಲದೆ ನಿಂದರೆ ಮುಂದಣ ನಾಲ್ಕು ಅವನ ಭಾವವ ತೊರೆದು ನೋಡೂದು.
ನೋಡಿ ನಿಶ್ಚಯವಾದ ಮತ್ತೆ
ಕೂಡೆಯಿಟ್ಟುಕೊಂಡಿರ್ಪ ಸಮಯದಲ್ಲಿ,
ಮೂಲಾಗ್ನಿಯ ಜ್ವಾಲೆಯಿಂದ ಮೇಲುವಾಯ್ದು
ಒತ್ತಿಲಿರ್ದ ತನ್ನ ತೆತ್ತಿಗರ ನಿಲ್ಲದಂತೆ ನೀಕರಿಸುತ್ತಿರಲು,
ಸಲಹಲಾರದ ತಾಯಿ ಶಿಶುವ ಬೈದು ಕೊಲುವಂತೆ
ತಮ್ಮ ತ್ಯಾಗದ ಮೈಮರೆದಿರ್ದಾತನ ಎಚ್ಚರ ಮಾಡಿ,
ನೀ ಮುನ್ನಲಿಂತಹವನೆಂದೆ ನುಡಿದು ಹೋಗುವ ನಿಷ್ಠೆ ಭಂಡರ
ಗುಹೇಶ್ವರ ಸಾಕ್ಷಿಯಾಗಿ ಅಲ್ಲಯ್ಯನೊಲ್ಲ ಸಂಗನಬಸವಣ್ಣಾ. ॥೬೧೭॥

೧೩೧೨

ನೀ ದೇವರೊಳಗೊ ? ದೇವರು ನಿನ್ನೊಳಗೊ ? ಎಂಬ ಠಾವನರಿಯೆ.
ಸಿಪ್ಪೆ ಒಪ್ಪೆಗೆಟ್ಟಾಗ ಹಣ್ಣಿನ ರಸ ಕೊಳಕಾಯಿತ್ತು,
ಅದು ಗುಹೇಶ್ವರನೊಪ್ಪದ ಮಾತು. ॥೬೧೮॥

೧೩೧೩

'ನೀನು' 'ನಾನು' ಎಂಬ ಉಭಯಸಂಗವಳಿದು ತಾನು ತಾನಾದ
ತ್ರಿಕೂಟವೆಂಬ ಮಹಾಗಿರಿಯ ತುಟ್ಟತುದಿಯ ಮೆಟ್ಟಿ ನೋಡಲು,
ಬಟ್ಟಬಯಲು ಕಾಣಬಹುದು ನೋಡಾ !
ಆ ಬಯಲ ಬೆರಸುವಡೆ – ತ್ರಿಕೂಟಗಿರಿಯೊಳಗೊಂದು ಕದಳಿಯುಂಟು ನೋಡಾ !
ಆ ಕದಳಿಯ ತಿಳಿದು ಅಲ್ಲಿ ಒಳಹೊಕ್ಕು ನೋಡಲು
ತೊಳಗಿ ಬೆಳಗುವ ಜ್ಯೋತಿಯುಂಟು ಕೇಳಾ !
ನಡೆ ಅಲ್ಲಿಗೆ ತಾಯೆ,
ಗುಹೇಶ್ವರಲಿಂಗದಲ್ಲಿ ಪರಮಪದವಿ ನಿನಗೆ ಸಯವಪ್ಪುದು ನೋಡಾ. ॥೬೧೯॥

೧೩೧೪

ನೀರ, ಧಾರುಣಿಯೊಳಗೆ ನಾರಿ ಶೃಂಗಾರವ ಮಾಡಿ,
ಈರೇಳು ಭವನವನಮಳೋಕ್ಯವ ಮಾಡಿ,
ಬಿಂದು ಶಕ್ತಿಯ ಭೇದ ಸಂದ ಯೋಗದ ಸುಖವ ತಂದು
ಮೂರ್ತಿಗೊಳಿಸಿದವರಾರು ?
ಒಂದೆರಡರ ನುಡಿಯ ಮತ್ತೊಂದು ಗ್ರಹಿಸಿತ್ತ ಕಂಡೆ.

ಬಿಂದುವಿನ ರಸದ ಪರೀಕ್ಷೆಯ ಭೇದವ
ಚಂದ್ರಕಾಂತದ ಗಿರಿಗೆ ಅರುಣ ಚಂದ್ರನೊಡನೆ
ಇಂಬಿನಲ್ಲಿಪ್ಪ ಪರಿಯ ನೋಡಾ !
ಅಂಗಯ್ಯ ತಳದೊಳು ಮೊಲೆ
ಕಂಗಳಲ್ಲಿ ಕರಸನ್ನೆಗೆಯ್ದಿಂಬಿನಲ್ಲಿ ನೆರೆವ ಸುಖ
ಅಂದಿನಾದಿಯ ಪ್ರತಿಬಿಂಬ ಇಂದೆನಗೆ ತೋರಿತ್ತು.
ಗುಹೇಶ್ವರನ ಶರಣ ಚನ್ನಬಸವಣ್ಣಂಗೆ ಶರಣೆನುತಿರ್ದೆನು. ॥೬೨೦॥

೧೩೧೫

ನೀರನೀಜುವನ ದೇಹ ಬಳಲುವುದಲ್ಲದೆ ನೀರು ಬಳಲುವುದೆ ?
ಸಮಯವ ನುಡಿದಡೆ ಸಮಯಕ್ಕೆ ನೋವಲ್ಲದೆ
ಗುಹೇಶ್ವರಲಿಂಗಕ್ಕೆ ಭ್ರಮೆಯಿಲ್ಲ (ನೋವಿಲ್ಲ ?) ಸಂಗನಬಸವಣ್ಣಾ. ॥೬೨೧॥

೧೩೧೬

ನೀರ ಬೊಂಬೆಯ ಚೋಹವ ತೊಟ್ಟು,
ಅಗ್ನಿಯ ಬಣ್ಣದ ಹೊದಕೆಯ ಹೊದ್ದು,
ಗಾಳಿಯ ಗತಿಯಲ್ಲಿ ಸುಳಿದಾಡುವ ಪ್ರಾಣಿಗಳು
ದೇವರನೆತ್ತ ಬಲ್ಲರು ಗುಹೇಶ್ವರಾ ? ॥೬೨೨॥

೧೩೧೭

ನೀರಲೊಗೆದ ಮರಕ್ಕೆ ಕಾಣಬಾರದ ನೆಳಲು !
ಬೀಜವಿಲ್ಲದ ಮರನ ಹೆಸರೇನೆಲವೊ ?
ಇದನೇನ ಬಲ್ಲಿರಿ ? ಇದನೇನ ಬಲ್ಲಿರಿ ?
ಅರಿವಿನ ಮರೆಯ ಘನಕ್ಕೆ ಘನವಾದುದ !
ಕಾಸಲಿಲ್ಲದ ತುಪ್ಪ, ವಾಸನೆಯಿಲ್ಲದ ಪರಿಮಳ !
ಗುಹೇಶ್ವರನಿಪ್ಪ ನಿರಾಳವ ನೋಡಯ್ಯಾ. ॥೬೨೩॥

೧೩೧೮

ನೀರು ಕ್ಷೀರದಂತೆ ಕೂಡಿದ ಭೇದವ. ಆರಿಗೂ ಹೇಳಲಿಲ್ಲ. ಕೇಳಲಿಲ್ಲ.
ಬೆಳುಗಾರ ಬೆರಸಿ ಬೆಚ್ಚ ಬಂಗಾರಕ್ಕೆ ಸಂದುಂಟೆ ಹೇಳಾ ?
ಉರಿಯುಂಡ ಕರ್ಪುರದ ಪರಿಯಂತಿರ್ದುದನು.
ಇದಿರಿಂಗೆ ಕೊಂಡಾಡಿ ಹೇಳಲುಂಟೆ ? ಆದಂತಿರಲಿ.–

ನಮ್ಮ ಗುಹೇಶ್ವರಲಿಂಗದ ಕಣ್ಣಮುಂದೆ,
ನಿಮ್ಮ ಧರ್ಮದಿಂದಲೊಂದು ಆಶ್ಚರ್ಯವ ಕಂಡು ಬದುಕಿದೆನು ಕಾಣಾ
ಸಂಗನಬಸವಣ್ಣಾ. ||೬೨೪||

೧೩೧೯

ನೀರೂ ನೆಳಲೂ ಇಲ್ಲದಂದು, ಷಡುಶೈವ (ದೈವ ?) ರಿಲ್ಲದಂದು.
ಬ್ರಹ್ಮಾಂಡ ಭಾಂಡ ಭಾಂಡಾವಳಿಗಳಿಲ್ಲದಂದು,
ಪಿಂಡಾಂಡ ಅಂಡ ಅಂಡಾವಳಿಗಳಿಲ್ಲದಂದು.
ಅಖಂಡಿತ ಜ್ಯೋತಿರ್ಮಯಲಿಂಗ ಶರಣನ ಲೀಲೆಯಿಂದಾದ
ಏಳು ತರದ ಗಣಪಿಂಡವಂ ಕಂಡು ಅಖಂಡಿತನಾಗಿ
ಬದುಕಿದೆನಯ್ಯಾ ಗುಹೇಶ್ವರಾ. ||೬೨೫||

೧೩೨೦

ನೀರೊಳಗೆ ಚಿತ್ರವ ಬರೆದಡೆ ಅದಾರ ಕಣ್ಣಿಗೆ ಕಾಣಬಹುದು ?
ಒಡಲು ಬರಿಯ ಬಯಲು ಬೊಮ್ಮವ ನುಡಿವಲ್ಲಿ
ಆ ಬೊಮ್ಮದ ಮಾತದೆಲ್ಲಿ ಬಿದ್ದಿತ್ತು ?
ಅದು ಸಾಕಾರದೊಡಲುಗೊಂಡು ನುಡಿಯಿತ್ತು.
ಆ ಉಭಯವನರಿದು ಅಡಗುವನ್ನಕ್ಕ
ನಮ್ಮ ಗುಹೇಶ್ವರಲಿಂಗವೆಂಬ ಕುರುಹು ಬೇಕು
ಕಾಣಾ ಎಲೆ ಅಂಬಿಗರ ಚೌಡಯ್ಯ. ||೬೨೬||

೧೩೨೧

......................ನುಂಗಿತ್ತು.
ದೂರ ಧಾತು ಸಾರಾಯದೊಳಡಗಿತ್ತು.
ಪುರದೊಳಗೈವರ ಶಿರ ಹರಿದು............ಮಳದೋಕುಳಿಯಾಗಿತ್ತ ಕಂಡೆ.
ಸಾರಿದ್ದ ಬ್ರಹ್ಮನ ಓಲಗ ಸೂರೆಯಾಯಿತ್ತು.
ಘೋರ ರುದ್ರನ ದಳ ಮುರಿಯಿತ್ತು, ಗುಹೇಶ್ವರಾ. ||೬೨೭||

೧೩೨೨

ನುಡಿಗೆಡೆಗೊಡದ ಘನವ ಹಿಡಿದು ಒಡಬಂದಿಯಾಳು.
ಎಡೆಯಿಲ್ಲದ ಪರಿಪೂರ್ಣದೊಳಗೆ ನಡೆನುಡಿಗೆಟ್ಟಳು.
ತನ್ನ ನಿಲುಕಡೆಯ ನಿಜವ ತಾನರಿಯದಂತೆ

ಎನ್ನಿಂದ ಕೇಳಿ ಸ್ವಯವಾದಳು.
ಗುಹೇಶ್ವರಲಿಂಗ ಸಾಕ್ಷಿಯಾಗಿ,
ಮಹಾದೇವಿಯಕ್ಕನ ನಿಲವ ಕೊಂಡಾಡುವುದಕ್ಕೆ
ತೆರಹಿಲ್ಲ ಕಾಣಾ ಮಡಿವಾಳಯ್ಯ. ||೬೨೮||

೧೩೨೩

ನೆನೆದೆಹೆನೆಂದಡೆ ಮನಕ್ಕೆ ಸಿಲುಕದು,
ಅರಿದೆಹೆನೆಂದಡೆ ಕುರುಹಿಂಗೆ ಬಾರದು,
ಕಂಡೆಹೆನೆಂದಡೆ ಮೂರ್ತಿಯಲ್ಲ.
ತನುವಿನೊಳಗಿಲ್ಲದ ಮನದೊಳಗಿಲ್ಲದ ಘನವು,
ನಿಮ್ಮ ಮನಕ್ಕೆ ವೇದ್ಯವಾದ ಪರಿ, ಎಂತಯ್ಯಾ ?
ಗುಹೇಶ್ವರನೆಂಬ ಲಿಂಗವು ಜಗದ ಕಣ್ಣಿಂಗೆ ಕತ್ತಲೆಯ ಕವಿಸಿ
ತನ್ನ ತಪ್ಪಿಸಿಕೊಂಡಿಪ್ಪ [ಅ] ಭೇದ
ನಿನ್ನೊಳಗಡಗಿದ ಪರಿ ಎಂತು ಹೇಳಾ ಸಂಗನಬಸವಣ್ಣಾ ? ||೬೨೯||

೧೩೨೪

ನೆನೆನೆನೆದು ಮನ ಘನವ ವೇಧಿಸಿತ್ತು.
ಕಂಡು ಕಂಡು ಮನ ಡಾವರಿಸಿತ್ತು
ತತ್‌ತಲ್ಲೀಯವಾಯಿತ್ತು, ತದುಗತ ಶಬ್ದ ಮುಗ್ಧವಾಯಿತ್ತು.
ಎತ್ತಣ ಗುಹೇಶ್ವರನೆಂದರಿಯದೆ,
ಉಭಯಲಿಂಗ ಒಳಕೊಂಡಿತ್ತಯ್ಯಾ. ||೬೩೦||

೧೩೨೫

ನೆನೆವಡೆ ಮನವಿಲ್ಲ. ತನುವಿನಾಸೆ ಮುನ್ನಿಲ್ಲ,
ನೆನೆವ ಮನವ ನೇತಿ ಮಾಡುವ
ಘನಕ್ಕೆ ಘನವನೇನೆಂಬೆನಯ್ಯಾ ?
ತನ್ನಿಂದ ತಾನಾದುದು ಭಿನ್ನವಿಲ್ಲದೆ ನಿಂದ ನಿಜವು !
ಅನಾಯಾಸದಿರವಿಂಗೆ ಬೆರಗಾದೆ ಗುಹೇಶ್ವರಾ. ||೬೩೧||

೧೩೨೬

ನೆಲದ[ತ್ತ] ಮುಂದಣ ಬಾಗಿಲು.
ಮೂರು ಮೊನೆಯ ಕಂಭದ ಶೂಲದಲ್ಲಿ ಒಂದು ದೇಗುಲ !

ಅಲ್ಲಿ ಒಳಗಣ ಹೂವಿನ ಕಲ್ಲಿನಲ್ಲಿ ಸಿಲುಕಿ (ನೆಲಸಿ?)
ನಾದ ಮೂರುತಿ ಲಿಂಗವಿಪ್ಪುದು.
ಒಂದು ಮಾತನಾಡಿದಡೆ ನುಡಿವುದು.
ಗುಹೇಶ್ವರ ಮೆಚ್ಚಲು, ಬಹುಮಾತಿನ ಮಾಲೆಯ ಅನುಭಾವಕ್ಕೆ
ನಾಚುವನು ಕಾಣಾ ಸಂಗನಬಸವಣ್ಣಾ. ॥೬೩೨॥

೧೩೨೭

ನೆಲನಿಲ್ಲದ ಠಾವಿನಲ್ಲಿ ಬೀಜವಿಲ್ಲದ ಮರ ಹುಟ್ಟಿತ್ತು.
ಅದು ಹೂವಿಲ್ಲದೆ ಕಾಯಾಯಿತ್ತು, ಕಾಯಿಲ್ಲದೆ ಹಣ್ಣಾಯಿತ್ತು
ಹಣ್ಣಿಲ್ಲದ ಸವಿರುಚಿಯ ಅಲ್ಲಮನುಂಡು
ತೃಪ್ತಿಯಾದ ಗುಹೇಶ್ವರನಲ್ಲಿ ! ॥೬೩೩॥

೧೩೨೮

ನೆಲೆಗಾಂಬನ್ನಕ್ಕರ ತೊರೆಯ ಅಂಜಿಕೆಯ್ಯೆಸೆ ?
ನೆಲೆಗಂಡ ಬಳಿಕ ತೊರೆ ಬರುದೊರೆಯಲ್ಲದೆ ಅಂಜಿಕೆಯಿಲ್ಲ.
ಮನವುಳ್ಳನ್ನಬರ ಕರ್ಮದ ಕೋಟಲೆಯ್ಯೆಸೆ ?
ಮನವಳಿದ ಬಳಿಕ ಕರ್ಮ ನಿಃಕರ್ಮವಲ್ಲದೆ
ಬೇಕು ಬೇಡೆಂಬ ಸಂದೇಹವುಂಟೆ,
ಗುಹೇಶ್ವರಾ ನಿಮ್ಮ ನಿಜವನರಿದ ಶರಣಂಗೆ ? ॥೬೩೪॥

೧೩೨೯

ನೆಲೆಯಿಲ್ಲದ ಮಹಾಜಲದೊಳಗೆ ಮಲಗಿರ್ದ
ಸರ್ಪನ ಫಣವ ನೋಡಲು,
ಬೆಳಬೆಳಗುತ್ತಿರ್ದವು ರಜತ ಹೇಮವೆಂಬ ಎರಡು ಕುಲಗಿರಿಗಳು.
ಎಡದ ಕೈಯಲ್ಲಿ ರಜತಗಿರಿಯಂ ಪಿಡಿದು
ಬಲದ ಕೈಯಲ್ಲಿ ಹೇಮಾದ್ರಿಯಂ ಪಿಡಿದು
ಮಹಾದಂಡಿಯ ಫಣೆಯ ಒದೆಯಲು
ನೆಗಹಿತ್ತು ಈರೇಳು ಭುವನವ.
ಅಲ್ಲಿಂದ ಮೇಲೆ, ಗಿರಿ ಎರಡು ವರ್ಣವಳಿದು ಅಡಗಿದವು ಚಿಕ್ಕಾಡಿನ ಹೃದಯದಲ್ಲಿ !
ಚಿಕ್ಕಾಡು ಕಂದೆರೆದು ಕಂಡಿತ್ತು ಚಿದಾಕಾಶವೆಂಬ ಶಿವಾಲಯವ !
ಅಂಗವಿಲ್ಲದ ಶೃಂಗಾರಕ್ಕೆ ಭಂಗ ಉಂಟೆ ? – ಇಲ್ಲವಾಗಿ,
ಗುಹೇಶ್ವರನೆಂಬ ಶಬ್ದಬ್ರಹ್ಮಕ್ಕೆ ಮುದ್ರಿಕೆಯಾಯಿತ್ತು. ॥೬೩೫॥

೧೩೩೦

"ನೇತ್ರಂ ದೇವೋ ನ ಚಾಪರಃ" ಎಂಬ ಶ್ರುತಿಯುಂಟಾಗಿ
ನೇತ್ರವು ಪರಶಿವಲಿಂಗ ಪರಬ್ರಹ್ಮವು.
"ನೇತ್ರಂ ಸರ್ವಜ್ಞ ಮೇ ವಪುಃ" ಎಂಬ ಶ್ರುತಿಯುಂಟಾಗಿ,
ನೇತ್ರವು ಶಿವಲಿಂಗಕ್ಕೆ ದೇಹವು.
"ನೇತ್ರಮಧ್ಯೋದ್ಭವಂ ಲಿಂಗಂ" ಎಂಬ ಶ್ರುತಿಯುಂಟಾಗಿ
ನೇತ್ರವು ಲಿಂಗಮೂರ್ತಿಯ ಹೆತ್ತ ತಾಯಿ.
"ನೇತ್ರಮಧ್ಯಜಚಿತ್ಸುಖಂ" ಎಂಬ ಶ್ರುತಿಯುಂಟಾಗಿ
ನೇತ್ರವು ಪರಶಿವೇಷ್ಟಲಿಂಗದ ಗುಹ್ಯಕ್ಕೆ ರಾಣಿವಾಸಮಕ್ಕುಂ.
"ದ್ವಿನೇತ್ರಕುಚಯೋರ್ಲಿಂಗಂ" ಎಂಬ ಶ್ರುತಿಯುಂಟಾಗಿ
ನೇತ್ರವು ಪ್ರಾಣಲಿಂಗದ ಹಸ್ತಂಗಳಿಗೆ ಪಿಡಿವ ಕುಚಂಗಳಕ್ಕುಂ.
"ಚಕ್ಷುಶ್ಚ ಶಿವ ಪುಷ್ಪಂ ಚ" ಎಂಬ ಶ್ರುತಿಯುಂಟಾಗಿ
ನೇತ್ರವು ಲಿಂಗಕ್ಕೆ ಅವಿರಳ ಪುಷ್ಪಮಕ್ಕುಂ.
"ಲಿಂಗಜ್ಯೋತಿಶ್ಚ ನೇತ್ರಯೋಃ" ಎಂಬ ಶ್ರುತಿಯುಂಟಾಗಿ
ನೇತ್ರಂಗಳು ಲಿಂಗಕ್ಕೆ. ಅಖಂಡ ಜ್ಯೋತಿಯಕ್ಕುಂ.
"ಲಿಂಗಾಭಿಷೇಕಂ ಚಕ್ಷುಶ್ಚ" ಎಂಬ ಶ್ರುತಿಯುಂಟಾಗಿ
ನೇತ್ರಂಗಳು ಲಿಂಗಕ್ಕೆ ಅಭಿಷೇಕವ ಮಾಡುವ ಕಳಸಂಗಳಕ್ಕುಂ
"ಲಿಂಗಸ್ಯ ಸಾಯಕಂ ನೇತ್ರಂ" ಎಂಬ ಶ್ರುತಿಯುಂಟಾಗಿ
ನೇತ್ರಂಗಳು ಲಿಂಗವನೊಳಗುಮಾಡಿಕೊಂಬುದಕ್ಕೆ ಹಾಕುವ ಬಾಣಂಗಳಕ್ಕುಂ.
"ಚಕ್ಷುರ್ಲಿಂಗಸ್ಯ ಚಾಕ್ಷುಷಿ" ಎಂಬ ಶ್ರುತಿಯುಂಟಾಗಿ.
ನೇತ್ರಂಗಳು ಲಿಂಗಮೂರ್ತಿಯ ನೇತ್ರಂಗಳಲ್ಲದೇ ಸ್ವಯಕ್ಕೆ ನೇತ್ರವಿಲ್ಲ.
ಈ ನೇತ್ರಂಗಳು ಲಿಂಗಮೂರ್ತಿಯ ನೋಟ ಬೇಟ ಕೂಟದಿಂ.
ಭಾವ ಮನ ದೃಕ್ಕೀಲೈಸಿ ನಟ್ಟ ದೃಷ್ಟಿಯಿಂ ನೋಳ್ಪ (ನೋಟ)
ಲಿಂಗೈಕ್ಯ ಶರಣಂಗಲ್ಲದೆ ಲೋಗರಿಗೆಲ್ಲಿಯದೊ ?
ಇದು ಗುಹ್ಯಕ್ಕೆ ಗುಹ್ಯ. ಗೋಪ್ಯಕ್ಕೆ ಗೋಪ್ಯ. ರಹಸ್ಯಕ್ಕೆ ರಹಸ್ಯ
ಈ ನೇತ್ರದ ಮಹಿಮೆಯ ಗುಹೇಶ್ವರನೇ ಬಲ್ಲನಲ್ಲದೆ
ಕಣ್ಣುಗೆಟ್ಟಣ್ಣಗಳಿವರೆತ್ತ ಬಲ್ಲರು ನೋಡಾ. ||೬೩೬||

೧೩೩೧

ನೇಮಸ್ಥ ಲಿಂಗವನರಿಯ.
ಸೂಳೆಯ ಮಗ ತಂದೆಯನರಿಯ.
ಪಿತೃಕಾರ್ಯ ಮಹಳವ ಮಾಡುವಲ್ಲಿ

ಆರ ಹೆಸರ ಹೇಳಿ ಮಾಡುವನಯ್ಯಾ ?
ಗುಹೇಶ್ವರಾ, ನಿಮ್ಮನರಿಯದವರನು ಉಭಯಭ್ರಷ್ಟರೆಂಬೆ. ||೬೩೭||

೧೩೩೨

ನೋಟದ ಸುಖ ಉಳ್ಳನ್ನಬರ ಬೆರಸಲೆಲ್ಲಿಯದೊ?
ಬೆರಸುವ ಭರ ಉಳ್ಳನ್ನಬರ ತವಕ ಹಿಂಗದು.
ನಿಮ್ಮ ನೋಡಿ ಕೂಡಿ ಸ್ವೈರಗಾದ ಸುಖವ, ಏನೆಂದುಪಮಿಸುವೆ
ಗುಹೇಶ್ವರಾ ? ||೬೩೮||

೧೩೩೩

ನೋಟವೆ ಕೂಟ, ಕೂಟವೆ ಪ್ರಾಣ,
ಪ್ರಾಣವೆ ಏಕ, ಏಕವೆ ಸಮರಸ,
ಸಮರಸವೆ ಲಿಂಗ, ಲಿಂಗವೆ ಪರಿಪೂರ್ಣ,
ಪರಿಪೂರ್ಣವೆ ಪರಬ್ರಹ್ಮ, ಪರಬ್ರಹ್ಮವೆ ತಾನು !–
ಇಂತೀ ನಿಜವ ಗುಹೇಶ್ವರ ಬಲ್ಲನಲ್ಲದೆ
ಕಣ್ಣುಗೆಟ್ಟಣ್ಣಗಳು ಎತ್ತ ಬಲ್ಲರು ನೋಡಯ್ಯಾ. ||೬೩೯||

೧೩೩೪

ನೋಡು ನೋಡಾ ಸಿದ್ಧರಾಮಯ್ಯಾ;
ಆಗಳೆ ಭಕ್ತರಿಗೆ ಅಹಂಕಾರವಾಯಿತ್ತು.
ಭೃತ್ಯನಿದ್ದೆಡೆಗೆ ಕರ್ತನೈತಂದಡೆ
ಅಟ್ಟಾಟಿಕೆಯಲ್ಲಿ ಇಂತು ಕರೆದವರುಂಟೆ ?
ಬಸವಣ್ಣನೊಳಗೆ ಇಂತು ಮರವೆ ಹುಟ್ಟಿದ ಬಳಿಕ
ಉಳಿದ ಶಿವಭಕ್ತರ ಪಾಡೇನು ಹೇಳಾ ?
ಗುಹೇಶ್ವರಲಿಂಗವನು ಭಕ್ತಿರತಿಯಿಂದ
ಮನಮುಟ್ಟಿ ಕರೆದಡೆ ಹೋಹುದಲ್ಲದೆ
ವ್ಯರ್ಥಕ್ಕೆ ಹೋಗಲಾರದು ನೋಡಯ್ಯಾ. ||೬೪೦||

೧೩೩೫

ನೋಡುವ ಸೂರ್ಯ ಸುರಿವ ಜಲ
ಹೊಲೆಸೆಲೆ ಶುದ್ಧ ಎಲ್ಲಕ್ಕೂ ಸರಿ.
ಅರಿದು ನುಡಿವವಂಗೆ, ಮರೆದು ನುಡಿದು ತಲ್ಲಣಿಸುವವಂಗೆ

ಅವನ ಹೃದಯವೆ ಸಾಕ್ಷಿ !
ಗುಹೇಶ್ವರಲಿಂಗಕ್ಕೆ ತಥ್ಯ ಮಿಥ್ಯವಿಲ್ಲ ಸಂಗನಬಸವಣ್ಣಾ. ॥೬೪೧॥

೧೩೩೬

ನೋಳ್ಪುದೆ ನೋಟದೊಳ್, ನೋಟವೆ ನೋಟಕನೊಳ್,
ನೋಟಕನೆ ಸಾಕ್ಷಿ, ಸಾಕ್ಷಿಯೆ ಲಿಂಗ.
ಲಿಂಗದಿಂದೆಲ್ಲವು, ಆ ಲಿಂಗಕ್ಕೆ ಕುರುಪಿಲ್ಲ.
ಲಿಂಗಕ್ಕೆ ಲಿಂಗವೇ, ಲಿಂಗವಿದು ಬಹು ಗುಹ್ಯ,
ಗುರುಲಿಂಗದೆರಕದಿಂ ಸಚ್ಛಿಷ್ಯನೆ ಬಲ್ಲ.
ಭವಿಗಳದನೆತ್ತ ಬಲ್ಲರು ?
ಕಣ್ಣುಗೆಟ್ಟವರು ನೋಡಾ ಗುಹೇಶ್ವರಾ. ॥೬೪೨॥

೧೩೩೭

ಪಂಚಭೂತ ತ್ರಿಗುಣವನು ಸಂಚರಿಸಿ
ರವಿಶಶಿಯ ಅಂತು ಕೂಡದ ರಜಬೀಜ
ಬದ್ಧ ಬಂಧವಾಯಿತ್ತೊ !
ಸಂಗತಿಯಿಲ್ಲದವನಲ್ಲ, ಪವನಗತಿಯ ನಡೆವವನಲ್ಲ.
ಭೇದಿಸುತ್ತಿದ್ದಿತು ಲೋಕವೆಲ್ಲ ಆತನ !
ರಜಬೀಜವಿಲ್ಲದ ಬಯಲು ಬದ್ಧವಾಯಿತ್ತೆ ?
ಇನ್ನೇನೆಂದು ಉಪಮಿಸುವೆ ಗುಹೇಶ್ವರಾ
ಸಿದ್ಧರಾಮನ ನಾಮವನು ? ॥೬೪೩॥

೧೩೩೮

ಪಂಚಮಹಾಪಾತಕಂಗಳು ಹೋಹ ಠಾವ ಕಂಡೆ.
ಸರ್ವದುಃಖಗಳು ಬೇವ ಠಾವ ಕಂಡೆ.
ಕಾಲನ, ಕಾಲಲೊದೆವ ಠಾವ ಕಂಡೆ.
ಕಾಮನ ಕೈಯ ಕೊಯ್ವ ಠಾವ ಕಂಡೆ.
ಮಾಯೆಯ ಬಾಯ ಕುಟ್ಟುವ ಠಾವ ಕಂಡೆ.
ಗುಹೇಶ್ವರಲಿಂಗಯ್ಯನ
ಎನ್ನ ಕರಸ್ಥಲದಲ್ಲಿ ಕಣ್ಣು ತುಂಬಿ ಕಂಡೆ. ॥೬೪೪॥

೧೩೩೯

ಪಂಚವರ್ಣದಬಿಂದು ಪ್ರಪಂಚವನಳಿದುಳಿದಿರಲು,
ಸಂಚರಿಸುವಡೆ ಆವೆಡೆಯೂ ಇಲ್ಲ.
ನಿಂದ ಚಿತ್ತಿನ ಪ್ರಭೆ ಅಂಗವನು ನೆರೆ ನುಂಗೆ,
ಹಿಂದು ಮುಂದು ಎಡಬಲನೆಂಬುದಿಲ್ಲ !
ಅಡಿಯಾಕಾಶವೆಂಬುದಿಲ್ಲ
ಕೆಳಗೆ ನಿಲಲು, ಆಧಾರ ಮೊದಲಿಂಗಿಲ್ಲ
ಕಡೆಗೆ ಸಾರುವೆನೆನಲು ಊರ್ಧ್ವವಿಲ್ಲ.
ನಡುವೆ ನಾನಿದ್ದಿಹೆನೆಂದಡೆ,
ತನ್ನೊಡಲೊಳಗೆ ಒಡೆದು ಮೂಡಿತ್ತು ತನ್ನಂತೆ ಬಯಲು !
ಈ ಬೆಡಗು ಬಿನ್ನಾಣವ ಬಡವರರಿವರೆ ?
ಇದನರಿದು ನುಡಿದು ತೋರಿದನು
ಗುಹೇಶ್ವರನ ಶರಣ ಚನ್ನಬಸವಣ್ಣನು. ॥೬೪೫॥

೧೩೪೦

ಪದ್ಮಾಸನದಲ್ಲಿ ಕುಳ್ಳಿರ್ದು, ಕುಂಡಲಿಯ ಸ್ಥಾನವನರಿದು,
ಅಂಡಲಿವ ಅಧೋವಾಯುವ ಊರ್ಧ್ವಮುಖವ ಮಾಡಿ
ಷಡಂಗುಲವನೊತ್ತಿ ಊರ್ಧ್ವವಾಯುವನಧೋಮುಖಕ್ಕೆ ತಂದು
ಉತ್ತರಪೂರ್ವದಕ್ಷಿಣವನತಿಗಳೆದು
ಪಶ್ಚಿಮದ ಸುಷುಮ್ನೆಯಲ್ಲಿ ಮನಶ್ಶಕ್ತಿಸಂಧಾನಸಂಯೋಗದಿಂದ
ಸಹಸ್ರದಳಕಮಲದಲ್ಲಿ ನಾದಬ್ರಹ್ಮವನೆಯ್ದಿ,
ಮಹಾವಾಸನಾಮೃತವ ದಣಿಯುಂಡು
ತ್ರಿಸಂಧಾನ ಒಂದಾದ ಬಳಿಕ – ಆತ್ಮ ಪರಮಾತ್ಮ ಇಂತಾಗಿ,
ಅಂತರಾತ್ಮ ವಿಚಾರಕ್ಕೆ ಇಳಿದಲ್ಲಿ ಅಭ್ಯಾಸಕ್ಕೆ ಬರಲಾಗದು.
ಅದೆಂತೆಂದಡೆ: ದೇವಲೋಕಕ್ಕೆ ಸಂದು ಮರಳಿ ಮಾನವನಪ್ಪಡೆ ಅದೇ ಪಾತಕ
ಹಸಿದವನಮೃತವನುಂಡು,
ಮರಳಿ ಹಸಿದು, ಉಂಡಿಹೆನೆಂದಡೆ ಅದೇ ಪ್ರಕೃತಿ ಗುಣ.
ಇದು ಕಾರಣ – ಪರಮಾತ್ಮ ತಾನಾದಾತನು, ಪರಮಾತ್ಮ ತಾನಾದನಾಗಿ
ತನ್ನಲ್ಲಿ ತಾನೆ ಏಕೀ ಭವಿಸಿರಬೇಕು, ಗುಹೇಶ್ವರಾ. ॥೬೪೬॥

೧೩೪೧

ಪದ್ಯದಾಸೆಯ ಹಿರಿಯರು ಕೆಲಬರು.
ಬುದ್ಧಿಯಾಸೆಯ ಹಿರಿಯರು ಕೆಲಬರು.
ಸಮತೆಯಾಸೆಯ ಹಿರಿಯರು ಕೆಲಬರು.
ಇವರೆಲ್ಲರು ತಮ್ಮ ನಿಜವ ತಾವರಿಯದೆ
ತಪವನಾಚರಿಸಿದರು.
ವೇಷ ನಿರ್ವಯಲಾಗಿ ಆಸೆ ರೋಷವ ಬಿಟ್ಟು
ದಾಸೋಹಿಯಾಗಿದ್ದಡೆ ತಾನೆ ಗುಹೇಶ್ವರಲಿಂಗ. ||೬೪೭||

೧೩೪೨

ಪರಮಜ್ಞಾನವೆಂಬ ಸಸಿಗೆ,
ಗುರುಭಕ್ತಿ ಎಂಬ ಭೂಮಿಯ ಮಣ್ಣ ತಂದು ಪಾತೆಯ ಕಟ್ಟಿದೆ
ಲಿಂಗಭಕ್ತಿ ಎಂಬ ಗೊಬ್ಬರವ ತುಂಬಿದೆ
ಜಂಗಮಭಕ್ತಿ ಎಂಬ ಪರಮಾನಂದದ ಜಲವ ನೀಡಿದೆ.
ಇಂತಿವರಿಂದ, ಭಕ್ತಿವೃಕ್ಷ ಫಲವ ಧರಿಸೆ
ಗುಹೇಶ್ವರಲಿಂಗದಲ್ಲಿ ಮುಕ್ತನಾದೆನು ಕಾಣಾ ಸಂಗನಬಸವಣ್ಣಾ. ||೬೪೮||

೧೩೪೩

ಪರಮಾರ್ಥದಲ್ಲಿ ಪರೀಕ್ಷಿಸಿ ತಿಳಿದು ನೋಡುವಡೆ
ಗುರುವಾರೂ ಇಲ್ಲ ಚೋಳ ತಪ್ಪಿಸಿ.
ಪರಮಾರ್ಥದಲ್ಲಿ ಪರೀಕ್ಷಿಸಿ ತಿಳಿದು ನೋಡುವಡೆ
ಭಕ್ತರಾರೂ ಇಲ್ಲ ಬಸವಣ್ಣ ತಪ್ಪಿಸಿ.
ಪರಮಾರ್ಥದಲ್ಲಿ ಪರೀಕ್ಷಿಸಿ ತಿಳಿದು ನೋಡುವಡೆ
ನಿರ್ವಾಣಿಗಳಾರೂ ಇಲ್ಲ ಅಕ್ಕಗಳು ತಪ್ಪಿಸಿ.
ಪರಮಾರ್ಥದಲ್ಲಿ ಪರೀಕ್ಷಿಸಿ ತಿಳಿದು ನೋಡುವಡೆ
ಹಿರಿಯರಾರೂ ಇಲ್ಲ ಚೀಲಾಳ ತಪ್ಪಿಸಿ.
ಪರಮಾರ್ಥದಲ್ಲಿ ಪರೀಕ್ಷಿಸಿ ತಿಳಿದು ನೋಡುವಡೆ
ಗಂಭೀರರಾರೂ ಇಲ್ಲ ಅಜಗಣ್ಣ ತಪ್ಪಿಸಿ.
ಇಂತೀ ಐದು ತೆರದನುವು ಆರಿಗೂ ಇಲ್ಲವೆಂದೆನಬೇಡ.
ಅವರ ಕರುಣ ಉಳ್ಳವರಿಗೆ ಆ ಮುಕ್ತಿಯುಂಟು.
ಆ ಐವರ ಕಾರುಣ್ಯದ ಪ್ರಸಾದವ ಕೊಂಡು
ನಾನು ಬಯಲಾದೆನು ಕಾಣಾ ಗುಹೇಶ್ವರಾ. || ೬೪೯||

೧೩೪೪

ಪರವನರಿದ ಸತ್ಪುರುಷರ ಸಂಗದಿಂದ
ಶಿವಯೋಗದ ವಚನಾಮೃತವನು,
ಸದ್ಭಕ್ತಿಯುಳ್ಳ ಮಹೇಶ್ವರನು ತನ್ನ ಶ್ರೋತ್ರಮುಖದಲ್ಲಿ ಕೇಳಿ,
ಮನೋಮುಖದಲ್ಲಿ ಹಾರೈಸಿ, ತೃಪ್ತಿಮುಖದಲ್ಲಿ ಸಂತೋಷವನೆಯ್ದಬಲ್ಲಡೆ
ಆ ಸುಖವು ಪರಿಣಾಮವನೊಡಗೂಡುವುದು !
ಹೀಂಗಲ್ಲದೆ,
ಸಂಸಾರವಿಷಯರಸವ ತಮ್ಮ ಹೃದಯಕೂಪದಲ್ಲಿ ತುಂಬಿಕೊಂಡಿಪ್ಪ ಜೀವರು
ಕಾಯದಲ್ಲಿ ವಚನಾಮೃತವ ತುಂಬಿದಡೆ,
ಭಿನ್ನಘಟದಲ್ಲಿ ಉದಕವ ಹೊಯ್ದಂತೆ ಕಾಣಾ ಗುಹೇಶ್ವರಾ. ॥೬೫೦॥

೧೩೪೫

ಪರುಷದ ಪುತ್ಥಳಿಗೆ ಕಬ್ಬುನದ ಆಭರಣಗಳುಂಟೆ ಅಯ್ಯಾ ?
ಲೋಕದೊಳಗೆ ಲಿಂಗ, ಲಿಂಗದೊಳಗೆ ಲೋಕವಾದಡೆ
ಹಿಂದಣ ಪ್ರಳಯಂಗಳೆಂತಾದವು ?
ಇನ್ನು ಮುಂದಣ ಪ್ರಳಯಗಳಿಗಿನ್ನೆಂತೊ ?
ಲೋಕವು ಲೋಕದಂತೆ, ಲಿಂಗವು ಲಿಂಗದಂತೆ,
ಈ ಉಭಯ ಭೇದವ ಗುಹೇಶ್ವರಾ ನಿಮ್ಮ ಶರಣ ಬಲ್ಲ. ॥೬೫೧॥

೧೩೪೬

ಪರುಷದ ಪುತ್ಥಳಿಗೆ ಲೋಹದ ಶೃಂಗಾರವೇತಕೊ ?
"ಲಿಂಗಮಧ್ಯೇ ಜಗತ್ಸರ್ವಂ ತ್ರೈಲೋಕ್ಯಂ ಸಚರಾಚರಂ ।
ಲಿಂಗಬಾಹ್ಯಾತ್ ಪರಂ ನಾಸ್ತಿ" ಎಂಬ ಭ್ರಾಂತೇಕೋ ?
ಲಿಂಗಮಧ್ಯೆ ಜಗತ್ಸರ್ವವಾದರೆ, ಈ ಆತ್ಮಂಗೆ
ಹಿಂದಣುತ್ಪತ್ತ್ಯ ಸ್ಥಿತಿಲಯಂಗಳೆಂತಾದವು ?
ಲಿಂಗ ಲಿಂಗದಂತೆ ಜಗ ಜಗದಂತೆ
ಲಿಂಗವನೊಳಗುಮಾಡಿ, ಜಗವ ಹೊರಗು ಮಾಡಬಲ್ಲನೆಮ್ಮ ಶರಣ,
ಗುಹೇಶ್ವರ ನೀನೇ ತಾನು. ॥೬೫೨॥

೧೩೪೭

ಪರುಷವ ತಂದು ಕಬ್ಬುನಕ್ಕೆ ಮುಟ್ಟಿಸಲು
ಚಿನ್ನವಪ್ಪುದಲ್ಲದೆ ಪರುಷವಾಗಬಲ್ಲುದೆ ?

ಈ ಲೋಕದ ಮನುಜರು ಶಿವಲಿಂಗವ ಕಟ್ಟಿದರೇನು,
ಲಿಂಗವಂತರಲ್ಲದೆ ಪ್ರಾಣಲಿಂಗಸಂಬಂಧಿಗಳಾಗಬಲ್ಲರೆ ?
ಶರಣ ಆವ ಕುಲದಲ್ಲಿ ಹುಟ್ಟಿದರೇನು ಆತನು,
ಆಚಾರ ವೀರಶೈವಸಂಪನ್ನ ಸಿದ್ಧಾಂತ
ಕ್ರಿಯಾ ಜ್ಞಾನ ಅನುಭಾವಯುಕ್ತವಾದ ಪ್ರಾಣಲಿಂಗಸಂಪನ್ನ.
ಆದಿ ಅನಾದಿಯಿಲ್ಲದಂದಿನ ನಿಃಕಲ ನಿಶ್ಶೂನ್ಯ ನಿರ್ಭೇದ್ಯ
ನಿರಾಳ ನಿರಂಜನ ಪರಾತ್ಪರತರನು ತಾನೆ ನೋಡಾ.
ಅಂತಪ್ಪ ಮಹಾತ್ಮನ ಕುಲಜನಕುಲಜನೆಂದು ಸಂದೇಹ ಸಂಕಲ್ಪದಿಂದ ದೂಷಿಸಿ
ಜರೆವ ದುರಾಚಾರಿ [ಗಳ] ಬಾಯಲ್ಲಿ
ಬಾಲಹುಳ ಸುರಿಯದೆ ಮಾಣ್ಬುದೆ ಗುಹೇಶ್ವರಾ. ||೬೫೩||

೧೩೪೮

ಪರುಷವಾದರೂ ಒಂದರಲ್ಲಿ ಇರಿಸಬೇಕು.
ರತ್ನವಿಶೇಷವಾದಡೂ ಕುಂದಣದಲ್ಲಿ ಬಂಧಿಸಿ ಸಂಧಿಸಬೇಕು.
ಲಿಂಗವ ಹಿಡಿದಲ್ಲಿ ಪೂಜಿಸುವ ಅಂಗವಿರಬೇಕು.
ಇದು ಕಾರಣ, ಗುಹೇಶ್ವರಲಿಂಗವನರಿದು
ಮರೆಯಲಿಲ್ಲ ಕಾಣಾ ಚಂದಯ್ಯಾ. ||೬೫೪||

೧೩೪೯

ಪಾರ್ವತಿಯು ಪರಶಿವನ ಸತಿಯೆಂಬ ಶಿವದ್ರೋಹಿಗಳು ನೀವು ಕೇಳಿರೆ.
ಬೆನಕನು ಪರಶಿವನ ಮಗನೆಂಬ ಪಾತಕ ದುಃಖಿಗಳು ನೀವು ಕೇಳಿರೆ.
ಸ್ವಾಮಿ ಕಾರ್ತಿಕೇಯನು ನಮ್ಮ ಹರಲಿಂಗನ ಮಗನೆಂಬ
ಲಿಂಗದ್ರೋಹಿಗಳು ನೀವು ಕೇಳಿರೆ.
ಭೈರವನು ಭಯಂಕರಹರನ ಮಗನೆಂಬ
ಭವಹರಗುರುದ್ರೋಹಿಗಳು ನೀವು ಕೇಳಿರೆ.
ಅಜಾತನ ಚರಿತ್ರ ಪವಿತ್ರ.
ನಮ್ಮ ಗುಹೇಶ್ವರಲಿಂಗಕ್ಕೆ ಪ್ರಸಾದವ ಸಲಿಸಿದಾತ
ಪೂರ್ವಾಚಾರಿ ಸಂಗನಬಸವಣ್ಣನ ಮಗನಾಗಿ,
ಆದಿಯ ಲಿಂಗ ಅನಾದಿಯ ಶರಣ
ಗುರುವಿನ ಗುರು ಪರಮಗುರುವರ[ನ]
ತೋರಿದೆನಯ್ಯಾ ಸಿದ್ಧರಾಮಯ್ಯ ಚೆನ್ನಬಸವಣ್ಣನು. ||೬೫೫||

೧೩೫೦

ಪುಣ್ಯಪಾಪವಿಲ್ಲಾಗಿ ಜನನದ ಹಂಗಿಲ್ಲ.
ಬಂದುದನುಂಬನಾಗಿ ಮಾನವರ ಹಂಗಿಲ್ಲ.
ಭವಗೆಟ್ಟನಾಗಿ ದೈವದ ಹಂಗಿಲ್ಲ.
ಸತ್ಯಜ್ಞಾನಾನಂದವೆ ತಾನಾಗಿ ಇನ್ನಾರ ಹಂಗಿಲ್ಲ.
ಇನ್ನಾರ ಹಂಗಿಲ್ಲದಾತ ಗುಹೇಶ್ವರಲ್ಲಯ್ಯನೊಬ್ಬನೆ ! ||೬೫೬||

೧೩೫೧

ಪುಣ್ಯವುಳ್ಳ ಕಾಲಕ್ಕೆ ಮಣ್ಣು ಹೊನ್ನಪ್ಪುದು,
ಪುಣ್ಯವುಳ್ಳ ಕಾಲಕ್ಕೆ ಪಾಷಾಣ ಪರುಷವಪ್ಪುದು ನೋಡಾ.
ಮುನ್ನ ಮುನ್ನವೆ,
ಅಚ್ಚೊತ್ತಿದ ಭಾಗ್ಯ ಎನ್ನ ಕಣ್ಣ ಮುಂದೆ ಕಾಣಬಂದಿತ್ತು ನೋಡಾ !
ಮಣ್ಣ ಮರೆಯ ದೇಗುಲದೊಳಗೊಂದು ಮಾಣಿಕ್ಯವ ಕಂಡಬಳಿಕ,
ಇನ್ನು ಮುನ್ನಿನಂತಪ್ಪುದೆ ಗುಹೇಶ್ವರಾ ? ||೬೫೭||

೧೩೫೨

ಪೂಜಿಸಿ ಕೆಳಯಿಂಕಿಳುಹಲದೇನೊ ?
ಅನಾಹತ ಪೂಜೆಯ ಮಾಡಲದೇನೊ ?
ದೇಹವೆ ಪೀಠಿಕೆ, ಜೀವವೆ ಲಿಂಗ ಗುಹೇಶ್ವರಾ. ||೬೫೮||

೧೩೫೩

ಪೂಜೆಯಾಯಿತ್ತದೇನೊ ? ಪೂಜೆಯ ಮೇಲೆ ಸಿಂಹಾಸನವಿದೇನೊ ?
ಧೂಪ ದೀಪ ನಿವಾಳಿ ಇದೇನೊ ?
ತಳದಲ್ಲಿ ಜ್ಯೋತಿ ಮೇಲೆ ಪ್ರಣತೆ !
ಕಳಸದ ಮೇಲಣ ನೆಲಗಟ್ಟು ಕಂಡು
ನೋಡಿ ಬೆರಗಾದೆ ಗುಹೇಶ್ವರಾ ! ||೬೫೯||

೧೩೫೪

ಪೂರ್ವಗುಣವನೆಲ್ಲ ಅಳಿದು ಪುನರ್ಜಾತನಾದ ಬಳಿಕ
ಗುರುವಿನ ಕರಸ್ಥಲದಲ್ಲಿ ಉತ್ಪತ್ತಿ ಸದ್ಭಕ್ತರಲ್ಲಿ ಸ್ಥಿತಿ ಲಿಂಗದಲ್ಲಿ ಲಯ–
ಇಂತೀ ನಿರ್ಣಯವನರಿಯದೆ;
ಶೀಲವಂತರ ಶೀಲ ತಪ್ಪಿದಡೆ ಹೇಳಬಹುದೆ ? ಹೇಳಬಾರದು.

ಸೂಳೆ ಮುತ್ತು ಗೊರವಿತಿಯಾದಂತೆ, ಬಂಟ ಮುತ್ತು ಬಾಗಿಲಕಾಯ್ದಂತೆ,
ನರಿ ಮುತ್ತು ಬಳ್ಳಾದಂತೆ, ಹಾವು ಮುತ್ತು ಸಿಂಗಿಯಾದಂತೆ !
ಎಲ್ಲ ದೇವರಿಗೆ ಮಸ್ತಕ ಪೂಜೆ ಜಂಗಮದೇವರಿಗೆ ಪಾದಪೂಜೆ.
ಪಾದೋದಕ ಪ್ರಸಾದವ ಕೊಡುವ ಜಂಗಮದೇವರು,
ಕಂಠಪಾವಡ ಧೂಳಪಾವಡ ಸರ್ವಾಂಗಪಾವಡ ಶೀಲಸಂಬಂಧವೆಂದಡೆ
ಕೇಸರಿ ಶುನಕನಾದಂತೆ ಕಾಣಾ ಗುಹೇಶ್ವರಾ. ॥೬೬೦॥

೧೩೫೫

ಪೃಥ್ವಿಯ ಕಠಿಣವ ಕೆಡಿಸಿ,
ಅಪ್ಪುವಿನ ಕೈಕಾಲು ಮುರಿದು,
ಅಗ್ನಿಯ ಕಿವಿ ಮೂಗಂ ಕೊಯ್ದು,
ವಾಯುವಿನ ಶಿರವರಿದು,
ಆಕಾಶವ ಶೂಲದಲ್ಲಿಕ್ಕಿದ ಬಲ್ಲಿದ ತಳವಾರನೀತ ನೋಡಯ್ಯಾ.
ಒಂಬತ್ತು ಬಾಗಿಲ ಬೀಗಮಂ ಬಲಿದು
ಒಡನೆ ನವಸಹಸ್ರ ಮಂದಿಯ ಕೊಂದುಳಿದ ಗುಹೇಶ್ವರಾ ನಿಮ್ಮ ಶರಣ. ॥೬೬೧॥

೧೩೫೬

ಪೃಥ್ವಿಯನತಿಗಳೆದು ಅಪ್ಪುವಿಲ್ಲ, ಅಪ್ಪುವನತಿಗಳೆದು ಅಗ್ನಿಯಿಲ್ಲ,
ಅಗ್ನಿಯನತಿಗಳೆದು ವಾಯುವಿಲ್ಲ, ವಾಯುವನತಿಗಳೆದು ಆಕಾಶವಿಲ್ಲ,
ಆಕಾಶವನತಿಗಳೆದು ನಾದವಿಲ್ಲ, ನಾದವನತಿಗಳೆದು ಬಿಂದುವಿಲ್ಲ.
ಬಿಂದುವನತಿಗಳೆದು ಕಳೆಯಿಲ್ಲ, ಕಳೆಯನತಿಗಳೆದು ಆತ್ಮನಿಲ್ಲ,
ಆತ್ಮವನತಿಗಳೆದು ಗುಹೇಶ್ವರನೆಂಬ ಲಿಂಗವಿಲ್ಲ. ॥೬೬೨॥

೧೩೫೭

ಪೃಥ್ವಿಯ ಪಾಷಾಣ ಪೃಥ್ವಿಯ ಮೇಲೆ ಬಿದ್ದು ಹೋದಡೆ
ಪ್ರಾಣಲಿಂಗ ಹೋಯಿತ್ತು, ಪ್ರಾಣಲಿಂಗ ಹೋಯಿತ್ತು ಎಂಬಿರಿ.
ಪ್ರಾಣಲಿಂಗ ಹೋದಡೆ ನೀವು ನುಡಿವ ಪರಿಯೆಂತು ?
ಅಂತರಂಗದಿ ಪ್ರಾಣಲಿಂಗಸಂಬಂಧದ ಸುದ್ದಿಯ (ಹೊಲಬ?) ನರಿಯರಾಗಿ.
ಗುಹೇಶ್ವರಾ, ನೀ ಮಾಡಿದ ಬೆಡಗು ಬಿನ್ನಾಣಕ್ಕೆ ನಾನು ಬೆರಗಾದೆನು ! ॥೬೬೩॥

೧೩೫೮

ಪೃಥ್ವಿಯ ಪೂರ್ವಾಶ್ರಯವ ಕಳೆಯದನ್ನಕ್ಕ
ಅಪ್ಪುವಿನ ಪೂರ್ವಾಶ್ರಯವ ಕಳೆಯದನ್ನಕ್ಕ

ತೇಜದ ಪೂರ್ವಾಶ್ರಯವ ಕಳೆಯದನ್ನಕ್ಕ
ವಾಯುವಿನ ಪೂರ್ವಾಶ್ರಯವ ಕಳೆಯದನ್ನಕ್ಕ
ಆಕಾಶದ ಪೂರ್ವಾಶ್ರಯವ ಕಳೆಯದನ್ನಕ್ಕ
ಚಂದ್ರ ಸೂರ್ಯರ ಪೂರ್ವಾಶ್ರಯವ ಕಳೆಯದನ್ನಕ್ಕ
ಆತ್ಮನ ಪೂರ್ವಾಶ್ರಯವ ಕಳೆಯದನ್ನಕ್ಕ
ಭಕ್ತರೆಂದು ಲಿಂಗವ ಪೂಜಿಸುವವರ ಕಂಡು
ಬೆರಗಾದೆನು ಕಾಣಾ ಗುಹೇಶ್ವರಾ. ॥೬೬೪॥

೧೩೫೯

ಪೃಥ್ವಿಯ ಮೇಲೊಂದು ಪರಮಶಾಂತಿ ಎಂಬ ಪರ್ವತವ ಕಂಡೆ.
ಆ ಪರ್ವತದ ಮೇಲೆ ಪರಮಗುರು ಪರಿಯಾಯವಾಯಿತ್ತ ಕಂಡೆ.
ಆ ಪರಿಯಾಯ ಗುರು ಒಂದು ಕಥನದಿಂದ ದೃಷ್ಟಿ ತೆರೆಯಿತ್ತ ಕಂಡೆ.
ಆ ದೃಷ್ಟಿಯ ಬೆಳಗಿನಿಂದ ನೆತ್ತಿಯ ಕಲಶ ಪುಟದೋರುತ್ತ ನಡೆದು
ಸಸಿಯಾಯಿತ್ತ ಕಂಡೆ.
ಆ ಸಸಿಯ ಕೆಳಗಣ ಮೃತ್ತಿಕೆ,
ಭಕ್ತರಿಗೆ ಮೂರಾಯಿತ್ತ ಕಂಡೆ ಗುಹೇಶ್ವರಾ. ॥೬೬೫॥

೧೩೬೦

ಪೃಥ್ವಿ ಹೋದತ್ತಲಿದೆ (ಹೊರುತ್ತಲಿದೆ ?) ಅಪ್ಪು ಉಲಿವುತ್ತಲಿದೆ.
ತೇಜ ಉರಿವುತ್ತಲಿದೆ. ವಾಯು ಹರಿಯುತ್ತಲಿದೆ.
ಆಕಾಶವಿಂಬುಗೊಡುತ್ತಲಿದೆ.
ಅಗಣಿತವಪ್ರಮಾಣವಾನಂದ ಗುಹೇಶ್ವರ ! ॥೬೬೬॥

೧೩೬೧

ಪೌರ್ಣಮಿ ಬಪ್ಪನ್ನಕ್ಕ,
ಬಾಯಿಬಂಧನದಲ್ಲಿದ್ದ ಚಕೋರನಂತಿದ್ದೆನಯ್ಯಾ.
ಉಣಲಾಗದೆಂಬ ಶಾಸ್ತ್ರವಿಡಿದು ಇದ್ದವನಲ್ಲ.
ಉಣಲಾಗದೆಂಬ ಶಾಸ್ತ್ರವುಂಟೆ ಲಿಂಗವಂತಂಗೆ ?
ಅಹೋರಾತ್ರಿ ಅಷ್ಟಭೋಗಂಗಳ ಲಿಂಗಕ್ಕೆ ಕೊಟ್ಟು ಕೊಳಬೇಕು.
ಮಾಡುವ ನೀಡುವ ನಿಜಭಕ್ತರಿಲ್ಲದ ಕಾರಣ, ಬಾಯ್ದೆರೆಯದಿದ್ದೆನು.
ಮಾಡಿಹೆ ನೀಡಿಹೆನೆಂಬ ಸಂತೋಷದ ಆಪ್ಯಾಯನ ಹಿರಿದಾಯಿತ್ತು.
ನೀಡಯ್ಯಾ ಸಂಗನಬಸವಣ್ಣಾ ಗುಹೇಶ್ವರಂಗೆ ! ॥೬೬೭॥

೧೩೬೨

ಪ್ರಕೃತಿಗುಣವುಳ್ಳನ್ನಕ್ಕರ ಭಕ್ತನಲ್ಲ.
ಕಾಮ ಕ್ರೋಧ ಲೋಭ ಮೋಹ ಮದ ಮತ್ಸರ ಉಳ್ಳನ್ನಕ್ಕರ ಶರಣನಲ್ಲ.
ಹಸಿವು ತೃಷೆ ನಿದ್ರೆ ವಿಷಯ ಉಳ್ಳನ್ನಕ್ಕರ ಪ್ರಸಾದಿಯಲ್ಲ.
ಆಚಾರದಲ್ಲಿ ಅನುಭಾವಿ ಪ್ರಸಾದದಲ್ಲಿ ಪರಿಣಾಮಿ,
ಗುಹೇಶ್ವರಲಿಂಗದಲ್ಲಿ ಚೆನ್ನಬಸವಣ್ಣನೆಂಬ ಪ್ರಸಾದಿಗೆ
ನಮೋ ನಮೋ ಎಂಬೆನು. ॥೬೬೮॥

೧೩೬೩

ಪ್ರಣಮವನುಚ್ಚರಿಸುವ ಪ್ರಮಾಣಿಕರೆಲ್ಲರು,
ಪ್ರಣವಮಂತ್ರದರ್ಥವ ತಿಳಿದು ನೋಡಿರೆ.
ಪ್ರಣವ 'ನಾಹು' ಎಂದುದೆ ?
ಪ್ರಣವ 'ಕೋಡಿಽಹಂ' ಎಂದುದೆ ?
ಪ್ರಣವ 'ಸೋಡಿಽಹಂ' ಎಂದುದೆ ?
ಪ್ರಣವ 'ಚಿದಹಂ' ಎಂದುದೆ ? – ಎನ್ನದಾಗಿ,
ಪ್ರಣವ 'ಭರ್ಗೋದೇವಸ್ಯ ಧೀಮಹಿ' ಎಂದುದು.
"ಸವಿತುಃ ಪದಮಂಗಃ ಸ್ಯಾತ್ ಭರ್ಗಸ್ತು ಲಿಂಗಮೇವ ಚ ।
ಧೀಮಹಿ ಪದಮಿತ್ಯೇಷಾಂ ಗಾಯತ್ರ್ಯಾಂ ಲಿಂಗಸಂಬಂಧಃ ॥" – ಎಂದುದಾಗಿ
ಪ್ರಣವದರ್ಥ ತಾನೆ ನಿಮ್ಮ ಮಯವು ಗುಹೇಶ್ವರಾ. ॥೬೬೯॥

೧೩೬೪

ಪ್ರಥಮದಲ್ಲಿ ವಸ್ತು ಅನಿರ್ವಾಚ್ಯವಾಗಿದ್ದಿತ್ತು.
ಆ ಅನಿರ್ವಾಚ್ಯವಾಗಿದ್ದ ಪರವಸ್ತು
ತನ್ನ ಲೀಲೆಯಿಂದ ತಾನೇ ಪರಬ್ರಹ್ಮವೆಂಬ ನಾಮವಾಯಿತ್ತು !
ಆ ನಾಮವನೆಯ್ದಿ ಕುಳವಾಯಿತ್ತು,
ಆ ಕುಳದಿಂದ ಆತ್ಮನೆಂಬ ಲಿಂಗಸ್ಥಲವಾಯಿತ್ತು.
ಆ ಸ್ಥಳ ಕುಳದೊಳಗೆಯ್ದಿ ಸ್ಥಳಕುಳವೆಂಬ ಎರಡಿಲ್ಲದೆ ನಿಂದಿತ್ತು.
ಅದೆಂತೆಂದಡೆ:
ವಾಙ್ಮನಕ್ಕಗೋಚರವಾದ ಪರಬ್ರಹ್ಮದಿಂದಾಯಿತ್ತು ಭಾವ.
ಭಾವದಿಂದಾಯಿತ್ತು ಜ್ಞಾನ. ಜ್ಞಾನದಿಂದಾಯಿತ್ತು ಮನ.
ಮನದಿಂದಾಯಿತ್ತು ಬುದ್ಧಿ. ಬುದ್ಧಿಯಿಂದಾಯಿತ್ತು ಚಿತ್ತ.
ಚಿತ್ತದಿಂದಾಯಿತ್ತು ಅಹಂಕಾರ.

ಇಂತು – ಅಹಂಕಾರ ಚಿತ್ತ ಬುದ್ಧಿ ಮನ ಜ್ಞಾನ ಭಾವ ಎಂದು ಆರಾದವು.
ಈ ಆರೂ ಕೆಟ್ಟಲ್ಲದೆ ವಾಙ್ಮನಕ್ಕಗೋಚರವಾದ ಪರಬ್ರಹ್ಮವಾಗಬಾರದು.
ಇದ ಕೆಡಿಸುವುದಕ್ಕೆ ಆರು ಸ್ಥಲವಾದವು.
ಅವಾವೆಂದಡೆ:
ಅಹಂಕಾರ ಅಡಗಿದಾಗ ಭಕ್ತಸ್ಥಲ,
ಚಿತ್ತದ ಗುಣ ಕೆಟ್ಟಾಗ ಮಾಹೇಶ್ವರಸ್ಥಲ
ಬುದ್ಧಿಯ ಗುಣ ಕೆಟ್ಟಾಗ ಪ್ರಸಾದಿಸ್ಥಲ,
ಮನೋಗುಣ ಅಳಿದಾಗ ಪ್ರಾಣಲಿಂಗಸ್ಥಲ,
ಜೀವನ ಗುಣ ಸಂದಾಗ ಶರಣ ಸ್ಥಲ
ಭಾವ ನಿರ್ಭಾವವಾದಾಗ ಐಕ್ಯಸ್ಥಲ.
ಇಂತು ಷಟ್ಸ್ಥಲವಾಗಿ ವಾಙ್ಮನಕ್ಕೆ ಅಗೋಚರವಾದ ಬ್ರಹ್ಮವೆ ಆತ್ಮನು.
ಆ ಆತ್ಮನಿಂದ ಆಕಾಶ ಹುಟ್ಟಿತ್ತು, ಆ ಆಕಾಶದಿಂದ ವಾಯು ಹುಟ್ಟಿತ್ತು.
ಆ ವಾಯುವಿನಿಂದ ಅಗ್ನಿ ಹುಟ್ಟಿತ್ತು,
ಆ ಅಗ್ನಿಯಿಂದ ಅಪ್ಪು ಹುಟ್ಟಿತ್ತು.
ಆ ಅಪ್ಪುವಿನಿಂದ ಪೃಥ್ವಿ ಹುಟ್ಟಿತ್ತು.
ಇಂತು – ಕುಳಸ್ಥಳವಾಗಿ ಸ್ಥಳಕುಳವಾದ ವಿವರವೆಂತೆಂದಡೆ:
ಪೃಥ್ವಿ ಅಪ್ಪುವಿನೊಳಡಗಿ, ಅಪ್ಪು ಅಗ್ನಿಯೊಳಡಗಿ,
ಅಗ್ನಿ ವಾಯುವಿನೊಳಡಗಿ, ವಾಯು ಆಕಾಶದೊಳಡಗಿ,
ಆಕಾಶ ಆತ್ಮನೊಳಡಗಿತ್ತು, ಆತ್ಮ ಪರಶಿವನಲ್ಲಿ ಅಡಗಿತ್ತು !
ಇಂತು – ಷಡಂಗವಡಗಿದ ಪರಿ ಎಂತೆಂದಡೆ:
"ಪೃಥ್ವೀ ಭವೇತ್ ಜಲೇ, ಜಲೇ ಮಗ್ನಾಜಲಂ ಗ್ರಸ್ತಂ ಮಹಾಗ್ನಿನಾ ।
ವಾಯೋರಸ್ತಮಿತಂ ತೇಜೋ ವ್ಯೋಮ್ನಿ ವಾತೋ ವಿಲೀಯತೇ
ವ್ಯೋಮಾತ್ಮನಿ ವಿಲೀನಂ ಸ್ಯಾತ್ ಆತ್ಮಾ ಪರಶಿವೇ ಪದೇ" ॥ –
ಎಂದುದಾಗಿ
ಆತ್ಮನು ಪರಬ್ರಹ್ಮದೊಳಡಗಿ ನಿಂದಿತ್ತು ಗುಹೇಶ್ವರಾ. ॥೬೭೦॥

೧೩೬೫

ಪ್ರಥಮದಲ್ಲಿ ವಸ್ತು ಏನೂ ಏನೂ ಇಲ್ಲದ
ಮಹಾಘನಶೂನ್ಯಬ್ರಹ್ಮವಾಗಿದ್ದಿತ್ತು.
ಅಂತಿರ್ದ ಪರವಸ್ತು ತಾನೆ, ತನ್ನ ಲೀಲೆಯಿಂದ, ತನ್ನ ದಿವ್ಯಾನಂದ
ಸ್ವಲೀಲಾ ಸ್ವಭಾವದಿಂದಾದುದು ಆತ್ಮನೆಂಬಂಗಸ್ಥಲ.
ಅಂತಾದ ಜೀವಾತ್ಮನೆಂಬ ಅಂಗಸ್ಥಲಕ್ಕೆ

ಸೇರಿದ ತತ್ವಂಗಳಿಪ್ಪತ್ತೈದು.
ಅವಾವುವಯ್ಯಾ ಎಂದಡೆ:
ಶ್ರೋತ್ರಾದಿ ಜ್ಞಾನೇಂದ್ರಿಯಂಗಳೈದು,
ವಾಗಾದಿ ಕರ್ಮೇಂದ್ರಿಯಂಗಳೈದು,
ಶಬ್ದಾದಿ ವಿಷಯಂಗಳೈದು,
ಪ್ರಾಣಾದಿ ವಿಷಯಂಗಳೈದು,
ಮನ ಬುದ್ಧಿ ಚಿತ್ತ ಅಹಂಕಾರ ಜೀವಂಗಳೈದು.–
ಅಂತು ಅಂಗ ತತ್ವಂಗಳಿಪ್ಪತ್ತೈದು.
ಇಂತು ಅಂಗತತ್ವ ಇಪ್ಪತ್ತೈದು ತನ್ನೊಳಗೆ ಸಮರಸತ್ವನೆಯ್ದಿ ಸಲೋಸುಗ,
ಭಕ್ತಿ ತದರ್ಥವಾಗಿ, ಆ ಮಹಾಘನ ಪರಾತ್ಪರವಪ್ಪ ದಿವ್ಯಲಿಂಗವು
ಹನ್ನೊಂದು ತತ್ವವಾಯಿತ್ತು.
ಇಂತೀ ಹನ್ನೊಂದು ತತ್ವದ ಪರಿಕ್ರಮವೆಂತೆಂದೊಡೆ:
ಶಾಂತ್ಯಾದಿ ಶಕ್ತಿಗಳೈದು,
ಶಿವಾದಿ ಸಾದಾಖ್ಯಗಳೈದು, ಪರಶಿವತತ್ವವೊಂದು.–
ಇಂತೀ ಲಿಂಗತತ್ತ್ವ ಹನ್ನೊಂದು.
ಆ ಅಂಗತತ್ತ್ವ ಲಿಂಗತತ್ತ್ವವೆಂಬ ಉಭಯತತ್ತ್ವ ಮೂವತ್ತಾರು.
ಇಂತಿವರ ಸಮರಸೈಕ್ಯವೆಂತುಂಟಯ್ಯಾ ಎಂದಡೆ:
ನಿವೃತ್ತಿಶಕ್ತಿಯನ್ನೈದಿ, ವಾಗಾದಿ ಕರ್ಮೇಂದ್ರಿಯಂಗಳೈದು
ಕರ್ಮ ಸಾದಾಖ್ಯವನೊಡಗೂಡಿದಲ್ಲಿ,
ಪೃಥ್ವಿ ತತ್ತ್ವ ಬಯಲಾಯಿತ್ತು.
ಪ್ರತಿಷ್ಠಾ ಶಕ್ತಿಯನ್ನೈದಿ, ಶಬ್ದಾದಿ ವಿಷಯಂಗಳೈದು
ಕರ್ತುಸಾದಾಖ್ಯವನೊಡಗೂಡಿದಲ್ಲಿ,
ಅಪ್ಪು ತತ್ತ್ವ ಬಯಲಾಯಿತ್ತು.
ವಿದ್ಯಾಶಕ್ತಿಯನ್ನೈದಿ, ಶ್ರೋತ್ರಾದಿ ಜ್ಞಾನೇಂದ್ರಿಯಂಗಳೈದು
ಮೂರ್ತಿ ಸಾದಾಖ್ಯವನೊಡಗೂಡಿದಲ್ಲಿ,
ತೇಜತತ್ತ್ವ ಬಯಲಾಯಿತ್ತು.
ಶಾಂತಿಶಕ್ತಿಯನ್ನೈದಿ, ಪ್ರಾಣಾದಿವಾಯುಗಳೈದು
ಅಮೂರ್ತಿಸಾದಾಖ್ಯವನೊಡಗೂಡಿದಲ್ಲಿ,
ವಾಯುತತ್ತ್ವ ಬಯಲಾಯಿತ್ತು.
ಶಾಂತ್ಯತೀತ ಶಕ್ತಿಯನ್ನೈಯ್ದಿ,
ಮನ ಬುದ್ಧಿ ಚಿತ್ತ ಅಹಂಕಾರ ಜೀವಂಗಳೈದು
ಶಿವಸಾದಾಖ್ಯವನೊಡಗೂಡಿದಲ್ಲಿ.

ಆಕಾಶತತ್ತ್ವ ಬಯಲಾಯಿತ್ತು.
ಇಂತೀ ಪಂಚವಿಂಶತಿತತ್ತ್ವಂಗಳು ಲಿಂಗೈಕ್ಯವಾಗಲೊಡನೆ,
ಲಿಂಗತತ್ತ್ವ ಹನ್ನೊಂದು ತಾವು ಒಂದೊಂದನೊಡಗೂಡಿ ಏಕಾರ್ಥವಾದಲ್ಲಿ,
ಕುಳಸ್ಥಲವಡಗಿತ್ತು.
ಇಂತು ಕುಳಸ್ಥಲ – ಸ್ಥಲಕುಳವಡಗಲೊಡನೆ,
ಮಹಾಘನ ಪರಾತ್ಪರವಪ್ಪ ದಿವ್ಯಲಿಂಗವು, ವಾರಿಕಲ್ಲು ಕರಗಿ ನೀರಾದಂತೆ
ತನ್ನ ಪರಮಾನಂದದಿಂದವೆ ಸರ್ವಶೂನ್ಯವಾಯಿತ್ತು.
ಅದೆಂತೆನಲು,
ಸಾಕ್ಷಿ:
ಅನಾದಿಸಿದ್ಧಸಂಸಾರಂ ಕರ್ತೃ ಕರ್ಮ ವಿವರ್ಜಯೇತ್ ।
ಸ್ವಯಂಮೇವ ಭವೇದ್ದೇಹೀ ಸ್ವಯಂಮೇವ ವಿಲೀಯತೇ ॥
ಅಂತಃ ಶೂನ್ಯಂ ಬಹಿಃ ಶೂನ್ಯಂ ಶೂನ್ಯಶೂನ್ಯಾ ದಿಶೋ ದಶ ।
ಸರ್ವಶೂನ್ಯಂ ನಿರಾಕಾರಂ ನಿರ್ದ್ವಂದ್ವಂ ಪರಮಂ ಪದಂ ॥
– ಎಂದುದಾಗಿ, ಇಂತೀ ಅಂಗ ತತ್ತ್ವವಿಪ್ಪತ್ತೈದು ಲಿಂಗತತ್ತ್ವ ಹನ್ನೊಂದು,
ಇಂತೀ ಉಭಯತತ್ತ್ವ ಏಕಾರ್ಥವಾಗಿ,
ಸರ್ವಶೂನ್ಯವನೆಯ್ದಿದ ಪರಿಕ್ರಮದ ನಿರ್ಣಯದ ಬೆಡಗು,
ತತ್ತ್ವಮಸ್ಯಾದಿ ವಾಕ್ಯಾರ್ಥಂಗಳಲ್ಲಿ ಕಾಣಲಾಯಿತ್ತು. – ಅದೆಂತೆಂದಡೆ:
ತತ್ಪದವೇ ಲಿಂಗ, ತ್ವಂ ಪದವೇ ಅಂಗ,
ಈ ಎರಡರ ಐಕ್ಯವೇ ಅಸಿ ಎಂದುದಾಗಿ .
ಇಂತು ಸಕಲನಾಗಬಲ್ಲ, ಸಕಲ ನಿಃಕಲನಾಗಬಲ್ಲ,
ಸಕಲ ನಿಃಕಲಾತೀತನಾಗಿ ಏನೂ ಏನೂ ಇಲ್ಲದ ಮಹಾ ಘನಶೂನ್ಯಬ್ರಹ್ಮವಾಗಿ
ಇರಬಲ್ಲನಯ್ಯಾ ನಮ್ಮ ಗುಹೇಶ್ವರಲಿಂಗವು ! ॥೬೭೧॥

೧೫೬೬

ಪ್ರಸಾದಲಿಂಗ ಉಳ್ಳನ್ನಕ್ಕರ, ಪ್ರಾಣಲಿಂಗವೆಂಬ ವಾರ್ತೆ
ಭಂಗ ನೋಡಾ ಬಸವಣ್ಣಾ.
ಬೀದಿಯಲ್ಲಿ ಕೊಡನನೊಡೆದು
ಬಯಲನುಡುಗಿದಡೆ ಉಂಟೆ ಹೇಳಾ ?
ಗುಹೇಶ್ವರಲಿಂಗವ ಬೇರೆಮಾಡಿ ಅರಸಲುಂಟೆ ಬಸವಣ್ಣಾ ? ॥೬೭೨॥

೧೫೬೭

ಪ್ರಸಾದಿಗಳು ಪ್ರಸಾದಿಗಳು ಎಂದೆಂಬಿರಿ
ಅಂದು ಇಂದು ಎಂದೂ. ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.

ಆದಿ ಅನಾದಿ ಇಲ್ಲದಂದು, ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ವೇದಶಾಸ್ತ್ರಂಗಳಿಲ್ಲದಂದು, ಚೆಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ಅಜಾಂಡ ಬ್ರಹ್ಮಾಂಡಕೋಟಿಗಳುದಯವಾಗದಂದು
ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ತ್ರೈಮೂರ್ತಿಗಳಿಲ್ಲದಂದು, ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ಉಮೆಯ ಕಲ್ಯಾಣವಿಲ್ಲದಂದು, ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ಗಂಗೆವಾಳುಕರಿಲ್ಲದಂದು, ಚೆನ್ನಬಸವಣ್ಣನೊಬ್ಬನೇ ಪ್ರಸಾದಿ.
ಲಿಂಗವೆಂಬ ನಾಮ ಜಂಗಮವೆಂಬ ಹೆಸರಿಲ್ಲದಂದು
ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ಗುಹೇಶ್ವರಾ ನೀನೆ ಲಿಂಗ, ಬಸವಣ್ಣನೆ ಗುರು
ಚೆನ್ನಬಸವಣ್ಣನೊಬ್ಬನೆ ಪ್ರಸಾದಿ.
ಮತ್ತಾರನು ಕಾಣೆನಯ್ಯಾ. ॥೬೭೩॥

೧೩೬೮

ಪ್ರಾಯದ ಪಿಂಡಕ್ಕೆ, ಮಾಯದ ದೇವರಿಗೆ,
ವಾಯಕ್ಕೆ, ಕಾಯವ ಬಳಲಿಸದೆ ಪೂಜಿಸಿರೊ.
ಕಟ್ಟುಗೂಂಟಕ್ಕೆ ಬಂದ ದೇವರ ಪೂಜಿಸಲು,
ಸೂಜಿಯ ಪೋಣಿಸಿ ದಾರವ ಮರೆದಡೆ,
ಹೊಲಿಗೆ ಬಿಚ್ಚಿತ್ತು ಗುಹೇಶ್ವರಾ. ॥೬೭೪॥

೧೩೬೯

ಪ್ರಾರಬ್ಧವಂತೆ–
ನೊಸಲಬರಹವೆಂತು ಹೋಯಿತ್ತೆನಬಹುದು ?
ನೊಸಲಬರಹವಂತೆ–
ಹಸ್ತಮಸ್ತಕ ಸಂಯೋಗವೆಂತಾಯಿತ್ತು ?
ಪ್ರಳಯವಂತೆ–
ಪ್ರಾಣಲಿಂಗವೆಂತುಟು ಹೇಳಾ, ಗುಹೇಶ್ವರಾ. ॥೬೭೫॥

೧೩೭೦

ಬಂದುದನತಿಗಳೆದು ಬಾರದುದ ಬಯಸೆನೆಂಬುದು
ಒಡಲ ಗುಣಧರ್ಮರಹಿತಂಗಲ್ಲದೆ.
ಒಡಲ ಗುಣಧರ್ಮ ಉಳ್ಳವಂಗೆ ಆಗದು ನೋಡಾ.

ಅದೆಂತೆಂದಡೆ:
ರಾಜಭಯ ಚೋರಭಯ ಮೃಗಭಯ ದೆಸೆಭಯ ಸ್ತ್ರೀಭಯ ಬಂದು ಸೋಂಕಿದಲ್ಲಿ
ಹೆಚ್ಚು ಕುಂದಿಲ್ಲದೆ ಒಂದೆ ಸಮವಾಗಿ ಕಾಣಬೇಕು.
ಕ್ಷೀರ ಘೃತ ನವರತ್ನ ಆಭರಣ ಮನೆ ಮಂಚ ಹಸು ಧನ ವನಿತೆಯರ ಭೋಗಂಗಳು,
ಲಿಂಗದಾಣತಿಯಿಂದ ಬಂದವೆಂದು,
ಬಿಡದೆ ಭೋಗಿಸುವ ಅಣ್ಣಗಳು ನೀವು ಕೇಳಿರೊ,
ಮದಸೊಕ್ಕಿದಾನೆ ಪೆರ್ಬುಲಿ ಕಾಳೋರಗ ಮಹಾಜ್ವಾಲೆ
ಅಪ್ರಯತ್ನದಿಂದ ಬಂದು ಸಂಧಿಸೆ,
ಸಂದು ಸಂಶಯವಿಲ್ಲದೆ 'ಲಿಂಗದಾಣತಿ' ಎನ್ನದಿದ್ದಡೆ
ಸ್ವಯವಚನ ವಿರುದ್ಧ ನೋಡಾ.
ಇದು ಜೀವಜಾಲಂಗಳ ಉಪಾಧಿಕೆಯಲ್ಲದೆ ನಿರುಪಾಧಿಕೆಯಲ್ಲ.
ಪೇಯಾಪೇಯವನರಿದು ಭೋಗಿಸಬೇಕು.
ಭಯ ಲಜ್ಜೆ ಮೋಹ ಉಳ್ಳನ್ನಕ್ಕರ ಎಂತಪ್ಪುದೊ ?
ಇದು ಕಾರಣ – ಅಂಗಕ್ಕಾಚಾರ, ಭಾವಕ್ಕೆ ಕೇವಲ ಜ್ಞಾನ.
ಬಂದಿತ್ತು ಬಾರದು ಎಂಬ ತಥ್ಯಮಿಥ್ಯ ರಾಗದ್ವೇಷವನಳಿದು
ತನ್ನ ನಿಜದಲ್ಲಿ ತಾನೆ ಪರಿಣಾಮಿಯಾಗಿಪ್ಪ[ನು]
ಗುಹೇಶ್ವರಾ ನಿಮ್ಮ ಶರಣ. ||೬೭೬||

೧೩೭೧

ಬಂ(ಬಿಂ?)ದು ನಿಂದು ಮೊ(ಹೊ?)ಲೆನೀರ ಮಿಂದವರೆಲ್ಲರು
ಹೆಂಡತಿಯರಾಗಬಲ್ಲರೆ ?
ಬಂದು ನಿಂದು ಸುಳಿದು ಮಾಡುವರೆಲ್ಲರು
ಸಂಗನಬಸವಣ್ಣನಂತೆ ಗುಹೇಶ್ವರಲಿಂಗವ ಬಲ್ಲರೆ ? ||೬೭೭||

೧೩೭೨

'ಬ' ಎಂಬಲ್ಲಿ ಎನ್ನ ಭವ ಹರಿಯಿತ್ತು.
'ಸ' ಎಂಬಲ್ಲಿ ಸರ್ವಜ್ಞನಾದೆನು.
'ವ' ಎಂಬಲ್ಲಿ ವಚಿಸುವಡೆ ಚೈತನ್ಯಾತ್ಮಕನಾದೆನು.
ಇಂತೀ ಬಸವಾಕ್ಷರತ್ರಯವೆನ್ನ ಸರ್ವಾಂಗದಲ್ಲಿ
ತೊಳಗಿ ಬೆಳಗುವ ಭೇದವನರಿದು
ಆನೂ ನೀನೂ 'ಬಸವಾ' 'ಬಸವಾ' 'ಬಸವಾ'
ಎನುತಿರ್ದೆವಯ್ಯಾ ಗುಹೇಶ್ವರಾ. ||೬೭೮||

೧೩೭೩

ಬಟ್ಟಬಯಲ ಮಹಾಮನೆಯೊಳಗೊಂದು
ಹುಟ್ಟದ ಹೊಂದದ ಶಿಶುವ ಕಂಡೆ.
ಮುಟ್ಟಿ ಪೂಜಿಸಹೋದಡೆ
ನೆಟ್ಟನೆ ಆ ಶಿಶು ತನ್ನುವ ನುಂಗಿತ್ತು
ಮುಟ್ಟಲಿಲ್ಲ ನೋಡಲಿಲ್ಲ, ಪೂಜೆಗೆ ಕಟ್ಟಳೆ ಮುನ್ನಿಲ್ಲ.
ಗುಹೇಶ್ವರ ಬಯಲು ! ॥೬೭೯॥

೧೩೭೪

ಬಟ್ಟೆಯ ಬಡಿವ ಕಳ್ಳಂಗೆ, ಬೇಹು ಸಂದು ಕಳವು ದೊರಕಿದಂತಾಯಿತ್ತು.
ಕುರುಡನು ಎಡಹುತ್ತ ತಡಹಿ ಹಿಡಿದು ಕಂಡಂತಾಯಿತ್ತು.
ನಿರ್ಧನಿಕ ಧನದ ಬಯಕೆಯಲ್ಲಿ ನಡೆವುತ್ತ ಎಡಹಿದ ಕಲ್ಲು
ಪರುಷವಾದಂತಾಯಿತ್ತು.
ಅರಸುವಂಗೆ ಅರಿಕೆ ತಾನಾದಂತಾಯಿತ್ತು.
ಎಲೆ ಗುಹೇಶ್ವರಾ ನೀನು ಎನಗೆ ದೊರಕುವುದೆಂಬುದು,
ನಾ ಮುನ್ನ ಮಾಡಿದ ಸುಕೃತದ ಫಲ ! ಏನ ಬಣ್ಣಿಪೆ ಹೇಳಾ ? ॥೬೮೦॥

೧೩೭೫

ಬಣ್ಣವುಂಡ ಚಿನ್ನದಂತೆ, ಬೆಣ್ಣೆ ಉಂಡ ಘೃತದಂತೆ,
ಪ(ಸ್ವ?)ರವುಂಡ ಶಬ್ದದಂತೆ, ಪರಿಮಳವುಳ್ಳ ಪುಷ್ಪದಂತೆ,
ಗುಹೇಶ್ವರಲಿಂಗದಲ್ಲಿ ಹೊರೆಯಿಲ್ಲದಿರ್ಪ ಸಂಗನಬಸವಣ್ಣನ
ಭಕ್ತಿಯಾಚಾರದ ಮಹಾತ್ಮೆಯೆಂತು ಪೇಳಾ ಮಡಿವಾಳ ಮಾಚಯ್ಯಾ. ॥೬೮೧॥

೧೩೭೬

ಬತ್ತೀಸಾಯುಧವನು ಅನಂತ ದಿನ ಸಾಧಿಸಿ ಪಿಡಿದರೂ
ಕಾದುವುದು ಒಂದೇ ಕೈದು ಒಂದೇ ದಿನ.
ಆ ಹಾಂಗೆ—ಫಲ ಹಲವಾದಡೂ
ಅರಿವುದೊಂದೇ ಮನ, ಒಂದೇ ಲಿಂಗ !
ಆ ಮನವು ಆಲಿಂಗದ ನೆಲೆಯಲ್ಲಿ ನಿಂದು ಸ್ಥಲಲೇಪವಾದ ಮತ್ತೆ
ಸ್ಥಲವಿಲ್ಲ ನಿಃಸ್ಥಲವಿಲ್ಲ, ನಿಜ ನೀನೇ ಗುಹೇಶ್ವರಾ. ॥೬೮೨॥

೧೩೭೭

ಬಯಕೆ ಎಂಬುದು ದೂರದ ಕೂಟ,
'ಬಯಸೆ' ಎಂಬುದು ಕೂಟದ ಸಂದು.
ಈ ಉಭಯವೂ ಕಪಟ ಕನ್ನಡವಲ್ಲದೆ ಸಹಜವಲ್ಲ.
ಕೂಡಿ ಕಂಡ ಪರಿಯೆಂತು ಹೇಳಾ ಇನ್ನು ಲಿಂಗೈಕ್ಯವನು ?
ಕೂಪ ಠಾವಿನಲ್ಲಿ ಪರವಶವಾದೆನೆಂಬ ಮಾತ ಮೆಚ್ಚುವನೆ
ನಮ್ಮ ಗುಹೇಶ್ವರಲಿಂಗ ? ॥೬೮೩॥

೧೩೭೮

ಬಯಲ ಪೀಠದಲ್ಲಿ ನಿರ್ವಯಲ ಕಂಡಿಹೆನೆಂದಡೆ,–
'ಅತ್ಯತಿಷ್ಠದ್ದಶಾಂಗುಲ' ಎಂಬ ಶ್ರುತಿಯ ನೋಡಲು,
ಮತ್ತೆ 'ವಾಚಾತೀತಂ ಮನೋತೀತಂ ಭಾವಾತೀತಂ ಪರಂ ಶಿವಂ '
ಎಂಬುದ ವಿಚಾರಿಸಿ ನೋಡೆ
ಸ್ಥಾನಮಾನಕ್ಕೆ ಬಂದಿತೆಂಬ ಶ್ರುತಿಯುಂಟೆ ?
ಕಾಯದ ಜೀವದ ಹೊಲಿಗೆಯ ಬಿಚ್ಚಿ, ನಾದ ಬಿಂದುವಂ ತಿಳಿದು
ಪರಿಪೂರ್ಣ ಜ್ಞಾನಿಯಾಗಿ, ಪರಿಪೂರ್ಣಶಿವನನೊಳಕೊಳ್ಳಬಲ್ಲ ಶರಣನೆ,
ಗುಹೇಶ್ವರಲಿಂಗದಲ್ಲಿ ಸಹಜ ಶಿವಯೋಗಿ ಕಾಣಾ ಸಿದ್ಧರಾಮಯ್ಯಾ. ॥೬೮೪॥

೧೩೭೯

ಬಯಲ ಮೂರ್ತಿಗೊಳಿಸಿದನೊಬ್ಬ ಶರಣ.
ಆ ಮೂರ್ತಿಯಲ್ಲಿ ಭಕ್ತಿಸ್ವಾಯತವ ಮಾಡಿದನೊಬ್ಬ ಶರಣ.
ಆ ಭಕ್ತಿಯನೆ ಸುಜ್ಞಾನ ಮುಖವ ಮಾಡಿದನೊಬ್ಬ ಶರಣ.
ಆ ಸುಜ್ಞಾನವನು ಲಿಂಗಮುಖವಾಗಿ ಧರಿಸಿದನೊಬ್ಬ ಶರಣ.
ಆ ಲಿಂಗವನೆ ಸರ್ವಾಂಗದಲ್ಲಿ ವೇಧಿಸಿಕೊಂಡನೊಬ್ಬ ಶರಣ.
ಆ ಸರ್ವಾಂಗವನೆ ನಿರ್ವಾಣಸಮಾಧಿಯಲ್ಲಿ ನಿಲಿಸಿದನೊಬ್ಬ ಶರಣ.
ನಾನು ನಿರ್ವಾಣದಲ್ಲಿ ನಿಂದು ಅಗಮ್ಯನಾದೆನೆಂದಡೆ,
ಭಕ್ತಿಕಂಪಿತನೆನಿಸಿ ಎನ್ನ ತನ್ನಲ್ಲಿಗೆ ಬರಿಸಿಕೊಂಡನೊಬ್ಬ ಶರಣ.
ಗುಹೇಶ್ವರಾ ನಿಮ್ಮ ಶರಣ ಸಂಗನಬಸವಣ್ಣನ ಶ್ರೀಪಾದವ ಕಂಡು
ಶರಣೆಂದು ಬದುಕಿದೆನು. ॥೬೮೫॥

೧೩೮೦

ಬಯಲಿಂಗೆ ಕಡೆಯಿಲ್ಲ ಮರುತಂಗೆ ತಡೆಯಿಲ್ಲ.
ರುಚಿಗೆ ಖಂಡಿತವಿಲ್ಲ ಸುಖಕ್ಕೊಗಡಿಕೆಯಿಲ್ಲ.
ಸುಖವೆ ಪರಬ್ರಹ್ಮಾನಂದವಾಗಿ ಶೂನ್ಯತೃಪ್ತಿಗೆ ಸೂತಕವಿಲ್ಲ !
ಸಾಕಾರಕ್ಕೆ ಸತ್‌ಕ್ರಿಯೆಯಿಂದರ್ಪಿಸಬೇಕು.
ಅದೆಂತೆಂದಡೆ:
ಲೋಹದ ಸಂಗದಿಂದ ಅಗ್ನಿ ಬಡಿವಡೆದಂತೆ
ರೂಪುಗೂಡಿದ ರುಚಿಯ ಸತ್ಕ್ರಿಯೆಯಿಂದರ್ಪಿಸಬೇಕು
ನಮ್ಮ ಗುಹೇಶ್ವರಲಿಂಗದಲ್ಲಿ ಸಂದು ಸಂಶಯವಿಲ್ಲದೆ. ॥೬೮೬॥

೧೩೮೧

ಬಯಸಿ ಬಂದುದು ಅಂಗಭೋಗ
ಬಯಸದೇ ಬಂದುದು ಲಿಂಗಭೋಗವೆಂದು ವಚನವನೋದಿ,
ಕಾರ್ಯಕ್ಕಾಗಿ ಬಂದ ವೇಷಧಾರಿಗಳ ಕಂಡು ಹಿಗ್ಗಿ ಹಾರೈಸಿ
ಅನ್ನದಾಶೆಯಿಂದ ಒಪ್ಪುಗೊಳಿಸಿ ಬಯಸಿ ಬಾಯಾರಿ ಬಳಲಬಾರದೆಂದು,
ಗೋಳಿಟ್ಟು, ಬಗುಳಾಡಿ, ಅನ್ನ ಅಶನೋಪಜೀವಿ
ಶೇಷ ಭೋಗಂಗಳಿಗೆ ಕಕ್ಕುಳ ಕುದಿದು ಬಿಕ್ಕನೆ ಬಿರಿದು
ಮತ್ತೆ ಲಿಂಗಾಣತಿಯೆಂಬ ವೇಷಧಾರಿಗಳಿಗೆ
ಅಘೋರನರಕ ತಪ್ಪದು ಗುಹೇಶ್ವರಾ. ॥೬೮೭॥

೧೩೮೨

ಬಯಸುವ ಬಯಕೆ ನೀನಾದ ಪರಿಯೆಂತು ಹೇಳಾ ?
ಅರಸುವ ಅರ(ರಿ?)ಕೆ ನೀನಾದ ಪರಿಯೆಂತು ಹೇಳಾ ?
ಕಾಯವೆ ಲಿಂಗ ಪ್ರಾಣವೆ ಜಂಗಮವಾದ ಶರಣಂಗೆ
ಬೇರೆ ದೇವಾಲಯ ಮಾಡಿಸಲೇಕೆ ಹೇಳಾ ?
ಗುಹೇಶ್ವರಲಿಂಗವು ಸಾಧ್ಯವಾಯಿತ್ತೆಂಬುದ ಮಾತಿನಲ್ಲಿ ಕಂಡೆನಲ್ಲದೆ.
ಕಾರ್ಯದಲ್ಲಿ ಕಾಣೆ ನೋಡಾ ಸಿದ್ಧರಾಮಯ್ಯಾ. ॥೬೮೮॥

೧೩೮೩

ಬಲ್ಲ ಹಿರಿಯರೆನಿಸಿಕೊಂಡು ಎಲ್ಲರನು ಕೂಡಿಕೊಂಡು
ಹಳ್ಳಿ ಹಿರಿಯರು ಪಟ್ಟಣದಲ್ಲಿ ತಿರಿದುಂಡು
ಅಲ್ಲದಾಟವನಾಡಿದಡೆ ತಮ್ಮ ಬಲ್ಲತನಕ್ಕೆ ಭಂಗವಾಯಿತ್ತು.

ಅಶನ, ವ್ಯಸನ, ಹಸಿವು, ತೃಷೆ, ನಿದ್ರೆ ಇಚ್ಛೆಗೆ
ಹರಿದಾಡುವರೆಲ್ಲ ಇನ್ನು ಬಲ್ಲರೆ ಹೇಳಿರೆ !
ಅನಂತ ಮೇಳಾಪದಚ್ಚಗೋಷ್ಠಿಯ
ಭಂಡರೆಲ್ಲ ಇನ್ನು ಬಲ್ಲರೆ, ಹೇಳಿರೆ !
ಕಾಮ, ಕ್ರೋಧ, ಲೋಭ, ಮೋಹ, ಮದ, ಮತ್ಸರದಿಚ್ಛೆಗೆ
ಹರಿದಾಡುವ ಹಂದಿಗಳೆಲ್ಲ
ನಾಯನೊಡನಾಡಿದ ಕಂದನಂತಾಯಿತ್ತು ಗುಹೇಶ್ವರಾ. ॥೬೮೯॥

೧೩೮೪

ಬಲ್ಲೆನು, ಒಲ್ಲೆ ಮರ್ತ್ಯದ ಹಂಗ,
ಹಿಂದಣ ಮರವೆಯಿಂದ ಬಂದು ನೊಂದೆ, ಸಾಕು.
ಇನ್ನು ಅರಿದೆ, ತ್ರಿವಿಧಪಾಶವ ಹರಿದೆ.
ಗುಹೇಶ್ವರಾ, ಇನ್ನು ಮರ್ತ್ಯದ ಸುಖವ ಮನದಲ್ಲಿ ನೆನೆದೆನಾದಡೆ
ನಿಮ್ಮಾಣೆ ನಿಮ್ಮ ರಾಣಿವಾಸದಾಣೆಯಯ್ಯಾ. ॥೬೯೦॥

೧೩೮೫

ಬಸವಣ್ಣ ಎಂಬಲ್ಲಿ ಎನ್ನ ಕಾಯ ಬಯಲಾಯಿತ್ತು.
ಚನ್ನಬಸವಣ್ಣ ಎಂಬಲ್ಲಿ ಎನ್ನ ಪ್ರಾಣ ಬಯಲಾಯಿತ್ತು.
ಈ ಉಭಯಸ್ಥಲ ನಿರ್ಣಯದ ನಿಷ್ಪತ್ತಿ,
ಗುಹೇಶ್ವರಲಿಂಗ ಸಾಕ್ಷಿಯಾಗಿ ಚನ್ನಬಸವಣ್ಣನಿಂದ
ಸಾಧ್ಯವಾಯಿತ್ತು ಕಾಣಾ ಸಂಗನಬಸವಣ್ಣಾ. ॥೬೯೧॥

೧೩೮೬

ಬಸವಣ್ಣನ ಉಂಗುಷ್ಠದಲ್ಲಿ,
ಅಷ್ಟಾಷಷ್ಟಿ ತೀರ್ಥಂಗಳ ಉದಕವ ಮೀರಿದ
ಮಹಾತೀರ್ಥದೊಟ್ಟಿಲ ಕಂಡೆನಯ್ಯಾ !
ಬಸವಣ್ಣನ ಆಧಾರ ಲಿಂಗ ನಾಭಿ ಪರಿಯಂತರವು
ಗುರುಸ್ವರೂಪದೊಟ್ಟಿಲ ಕಂಡೆನಯ್ಯಾ.
ಬಸವಣ್ಣನ ನಾಭಿ ಹೃದಯ ಪರಿಯಂತರವು
ಲಿಂಗಸ್ವರೂಪದೊಟ್ಟಿಲ ಕಂಡೆನಯ್ಯಾ.
ಬಸವಣ್ಣನ ಗಳ ಮುಖ ಭ್ರೂಮಧ್ಯ ಉನ್ಮನಿ
ಉತ್ತಮಾಂಗ ಪರಿಯಂತರವು

ಜಂಗಮಸ್ವರೂಪದೊಟ್ಟಿಲ ಕಂಡೆನಯ್ಯಾ.
ಬಸವಣ್ಣನ ವಿಶ್ವತೋಮುಖವನುಳ್ಳ ಶರೀರದೊಳಗೆ,
ಈ ಪರಿಯ ಕಂಡಾತನೆ ಭಕ್ತ,
ಜಂಗಮವೆಂಬೆನು ಕಾಣಾ ಗುಹೇಶ್ವರಾ. ॥೬೨॥

೧೩೮೭

ಬಸವಣ್ಣ ನಿನ್ನ ಹೊಗಳತೆ ಅಂತಿರಲಿ, ಎನ್ನ ಹೊಗಳತೆ ಅಂತಿರಲಿ,
ಗುರುವಾಗಬಹುದು ಲಿಂಗವಾಗಬಹುದು ಜಂಗಮವಾಗಬಹುದು,
ಇಂತೀ ತ್ರಿವಿಧವೂ ಆಗಬಹುದು.
ನಿನ್ನ ಆಚಾರಕ್ಕೆ ಪ್ರಾಣವಾಗಿ, ಎನ್ನ ಜ್ಞಾನಕ್ಕೆ ಆಚಾರವಾಗಿ
ಈ ಉಭಯ ಸಂಗದ ಸುಖದ ಪ್ರಸನ್ನಕ್ಕೆ
ಪರಿಣಾಮಿಯಾಗಿ ಬಂದ ಘನಮಹಿಮನು
ಗುಹೇಶ್ವರಲಿಂಗದಲ್ಲಿ ಚನ್ನಬಸವಣ್ಣನಾಗಬಾರದು ಕಾಣಾ
ಸಂಗನಬಸವಣ್ಣಾ. ॥೬೩॥

೧೩೮೮

ಬಸವಣ್ಣನೆ ಪ್ರಾಣಲಿಂಗವೆಂದು ಭಾವಿಸಿ,
ದೃಷ್ಟಿನಟ್ಟು ಸ್ವೈರವೆರಗಾದುದ ಕಂಡೆ– ಕಲ್ಪಿಸಿ
ಮನ ನಟ್ಟು ನಿಬ್ಬೆರಗಾಯಿತ್ತಯ್ಯಾ !
ಗುಹೇಶ್ವರಾ ನಿಮ್ಮಲ್ಲಿ, ಸರ್ವನಿರ್ವಾಣಿ
ಸಂಗನಬಸವಣ್ಣನೆ ಎನ್ನ ಪ್ರಾಣಲಿಂಗವೆಂದರಿದು
ನೀನೆನ್ನ ಒಳಕೊಂಡ ಗುರುವೆಂದು ಕಂಡೆನಯ್ಯಾ
ನಿಮ್ಮ ಧರ್ಮ ನಿಮ್ಮ ಧರ್ಮ. ॥೬೪॥

೧೩೮೯

ಬಸವಣ್ಣಾ ನಿನಗೇಳು ಜನ್ಮ, ನನಗೆ ನಾಲ್ಕು ಜನ್ಮ,
ಚನ್ನಬಸವಣ್ಣಗೊಂದೆ ಜನ್ಮ.
ನೀನು ಗುರುವೆನಿಸಿಕೊಳಬೇಡ,
ನಾನು ಜಂಗಮವೆನಿಸಿಕೊಳಬೇಡ,
ನಾವಿಬ್ಬರು ಚೆನ್ನಬಸವಣ್ಣನ ಒಕ್ಕುಮಿಕ್ಕ ಪ್ರಸಾದವ ಕೊಳ್ಳದಡೆ
ನಮ್ಮ ಗುಹೇಶ್ವರ ಸಾಕ್ಷಿಯಾಗಿ
ಭವಂ ನಾಸ್ತಿಯಾಗದು ಕಾಣಾ ಸಂಗನಬಸವಣ್ಣಾ. ॥೬೫॥

೧೩೯೦

ಬಸವಣ್ಣಾ ನಿನ್ನ ಕಂಡು ಎನ್ನ ತನು ಬಯಲಾಯಿತ್ತು.
ಬಸವಣ್ಣಾ ನಿನ್ನ ಮುಟ್ಟಿ ಮುಟ್ಟಿ ಎನ್ನ ಕ್ರೀ ಬಯಲಾಯಿತ್ತು.
ಬಸವಣ್ಣಾ ನಿನ್ನ ನೆನೆ ನೆನೆದು ಎನ್ನ ಮನ ಬಯಲಾಯಿತ್ತು.
ಬಸವಣ್ಣಾ ನಿನ್ನ ಮಹಾನುಭಾವವ ಕೇಳಿ ಕೇಳಿ ಎನ್ನ ಭವಂ ನಾಸ್ತಿಯಾಯಿತ್ತು.
ನಮ್ಮ ಗುಹೇಶ್ವರಲಿಂಗದಲ್ಲಿ ನೀನು ಅಜಾತನೆಂಬುದ ನೆಲೆಮಾಡಿ
ಭವಪಾಶಂಗಳ ಹರಿದಿಪ್ಪೆಯಾಗಿ,
ನಿನ್ನ ಸಂಗದಿಂದಲಾನು ಬದುಕಿದೆನು ! ||೯೯೬||

೧೩೯೧

ಬಸಿರೊಳಗಣ ಕೂಸಿಂಗ ಬೇರೆ ಊಟ ಬೇರೆ ಮೋಹ ಉಂಟೆ ?
ಜ್ಞಾನವೆಂಬ ಗರ್ಭದೊಳಗೆ ಲಿಂಗವೆಂಬ ಶಿಶುವಿರಲು
ಬೇರೆ ಕೊಡುವ ಕೊಂಬ ಪರಿಯೆಂತೊ ?
ದೇಹದೊಳಗಿನ ಪ್ರಾಣವ ಬೇರೆ ಮಾಡಿ ಭೋಗಿಸಲುಂಟೆ ?
ಅನುಮಾನ ಅಳಿದು ಮಹದಲ್ಲಿ ಮನ ಮುಸುಕಿದ ಬಳಿಕ
ಭಿನ್ನವ ಮಾಡಲುಂಟೆ ಗುಹೇಶ್ವರಾ ? ||೯೯೭||

೧೩೯೨

ಬಾರದುದೆಲ್ಲವನು ಹಿಂಗಿ, ಬಂದುದನೆಲ್ಲವನು ನುಂಗಿ,
ಆರಿಗೂ ಇಲ್ಲದ ಅವಸ್ಥೆ ಎನಗಾಯಿತ್ತಯ್ಯಾ.
ಆ ಅವಸ್ಥೆಯರತು, ನಾನು ನೀನೆಂದಿದ್ದೆ ಕಾಣಾ ಗುಹೇಶ್ವರಯ್ಯಾ. ||೯೯೮||

೧೩೯೩

ಬಿಂದುವೆ ಪೀಠವಾಗಿ, ನಾದವೇ ಲಿಂಗವಾದಡೆ
ಅದು ಭಿನ್ನಲಿಂಗ ನೋಡಾ.
ಕಳೆ ಎಂಬ ಪೂಜೆ ನಿರ್ಮಾಲ್ಯವಾಗಿ,
ನಾದಬಿಂದುಕಳಾತೀತ ನೋಡಾ ಮಹಾಘನವು.
ಅಲ್ಲಿ ಇಲ್ಲಿ ಸಿಲುಕಿದ ಅಚಲವಪ್ಪ ನಿರಾಳವ
ಪ್ರಣವರೂಪೆಂದು ಹೆಸರಿಡಬಹುದೆ ?
ನಮ್ಮ ಗುಹೇಶ್ವರನ ನಿಲುವು 'ನಿಶ್ಶಬ್ದಂ ಬ್ರಹ್ಮ ಉಚ್ಯತೇ'
ಎಂಬುದನರಿಯಾ ಸಿದ್ಧರಾಮಯ್ಯಾ ? ||೯೯೯||

೧೩೯೪

ಬಿಳಿಯ ಮುಗಿಲ ನಡುವಣ ಕರಿಯನಕ್ಷತ್ರ ಮಧ್ಯದಲ್ಲಿ
ಉರಿಯ ಅಂಕುರ ಹುಟ್ಟಿ ಒಂದೆರಡೆಂಬಂತೆ ತೋರುತ್ತದೆ,
ಹೊಸ್ತಿಲ ಜ್ಯೋತಿಯಂತೆ ಒಳಹೊರಗೆ ಬೆಳಗುತ್ತದೆ.
ಅದು ನೋಡಿದಡೆ ಘನ, ನೋಡದಿದ್ದಡೆ ಸಹಜ.
ಈ ಭೇದವ ಗುಹೇಶ್ವರಲಿಂಗದಲ್ಲಿ ಚನ್ನಬಸವಣ್ಣ ಬಲ್ಲನು.
ಬೆಸಗೊಂಬ ಬಾರಾ ಸಿದ್ಧರಾಮಯ್ಯಾ. ॥೭೦೦॥

೧೩೯೫

ಬೀದಿಯಲ್ಲಿ ಬಿದ್ದ ಮಾಣಿಕ್ಯವು, ಹೂಳಿದ್ದ ನಿಧಾನವು,
ಆರಿಗೂ ಕಾಣಬಾರದು ನೋಡಾ !
ಮರಣ ಉಳ್ಳವರಿಗೆ ಮರುಜವಣಿ ಸಿಕ್ಕುವುದೆ ?
ಪಾಪಿಯ ಕಣ್ಣಿಂಗೆ ಪರುಷ ಕಲ್ಲಾಗಿಪ್ಪಂತೆ
ಇಪ್ಪರಯ್ಯಾ ಶಿವಶರಣರು.
ನಮ್ಮ ಗುಹೇಶ್ವರನ ಶರಣ ಮರುಳಶಂಕರದೇವರ
ನಿಲವ ನೋಡಾ ಸಂಗನಬಸವಣ್ಣಾ. ॥೭೦೧॥

೧೩೯೬

ಬೆಂಕಿ ಸುಡಬಲ್ಲಡೆ ಕಲ್ಲು ನೀರು ಮರಂಗಳಲ್ಲಡಗಬಲ್ಲುದೆ ?
ಅರಿವು ಶ್ರೇಷ್ಠವೆಂದಡೆ ಕುರುಹಿನಲ್ಲಡಗಿ
ಬೇರೊಂದೆಡೆಯುಂಟೆಂದು ನುಡಿವಾಗ ಅದೇತರಲ್ಲಿ ಒದಗಿದ ಅರಿವು ?
ಪಾಷಾಣದಲ್ಲಿ ಒದಗಿದ ಪ್ರಭೆಯಂತೆ,
ಆ ಪಾಷಾಣ ಒಡೆಯೆ ಆ ಪ್ರಭೆಗೆ ಕುರುಹುಂಟೆ ?
ಇಂತೀ ಲೇಸಪ್ಪ ಕುರುಹಸರಿಯಬೇಕು ಕಾಣಾ,
ನಮ್ಮ ಗುಹೇಶ್ವರನುಳ್ಳನ್ನಕ್ಕ ಅಂಬಿಗರ ಚೌಡಯ್ಯ. ॥೭೦೨॥

೧೩೯೭

ಬೆಳಗಪ್ಪ ಜಾವದಲ್ಲಿ ಲಿಂಗವ ಮುಟ್ಟಿ ಪೂಜಿಸಿ
ಪ್ರಾತಃಕಾಲದಲ್ಲಿ ಜಂಗಮದ ಮುಖದ ನೋಡಿದಡೆ,
ಹುಟ್ಟಿದೇಳು ಜನ್ಮದ ಪಾಪ ಹಿಂಗುವುದು.
ಅದೆಂತೆಂದಡೆ:

'ಸೂರ್ಯೋದಯವೇಲಾಯಾಂ ಯಃ ಕರೋತಿ ಶಿವಾರ್ಚನಂ
ಋಣತ್ರಯವಿನಿರ್ಮುಕ್ತೋ ಯಸ್ಯಾಂತೇ ಬ್ರಹ್ಮ ತತ್ಪದಂ ॥' – ಎಂದುದಾಗಿ
ಇಂತಪ್ಪ ಸತ್ಕ್ರೀ ಇಲ್ಲದವರನೊಲ್ಲ ನಮ್ಮ ಗುಹೇಶ್ವರ. ॥೭೦೩॥

೧೩೯೮

ಬೆಳಗಿನೊಳಗಣ ಬೆಳಗ ಕಡೆದಡೆ ಮರಳಿ ಕೂಡಿತ್ತಲ್ಲಾ !
ಮೇರುವನೆ ಬೋನವ ಮಾಡಿ ಸವಿದ ಭಕ್ತರ ನೋಡಾ !
ಅಡಗನಾರೋಗಣೆಯ ಮಾಡಿದ ಲಿಂಗವ
ಕೊಡಗೂಸು ನುಂಗಿತ್ತ ಕಂಡೆ ಗುಹೇಶ್ವರಾ. ॥೭೦೪॥

೧೩೯೯

ಬೆಳಗಿನೊಳಗೊಂದು ಬೆಳಗು ದೊರೆಕೊಂಡಡೆ
ಮತ್ತೊಂದು ಬೆಳಗು ಮತ್ತೆಲ್ಲಿಯದೊ ?
ಘನದೊಳಗೊಂದು ಘನವು ದೊರೆಕೊಂಡಡೆ
ಮತ್ತೊಂದು ಘನವು ಮತ್ತೆಲ್ಲಿಯದೊ ?
ಸಮೀಪನ ಮೇಲೆ ಸಮೀಪ ದಾಳಿವರಿದನು.
ಗುಹೇಶ್ವರನ ಶರಣ ಚನ್ನಬಸವಣ್ಣನು ! ॥೭೦೫॥

೧೪೦೦

ಬೆಳಗುವ ಜ್ಯೋತಿಯ ತಿರುಳಿನಂತೆ ಹೊಳೆವ ಕಂಗಳ ಕಾಂತಿ,
ಒಳಹೊರಗೆನ್ನದೆ ಅಳವಟ್ಟ ಶಿವಯೋಗಿಯ ಕಂಡೆ ನೋಡಾ !
ನಿಜ ಉಂಡ ನಿರ್ಮಲದ ಘನವ ಕಂಡು ಬೆರಗಾದೆ ನಾನು
ಗುಹೇಶ್ವರಲಿಂಗದಲ್ಲಿ ಚನ್ನಬಸವಣ್ಣನಿಂದ ಆನು ಬದುಕಿದೆನು. ॥೭೦೬॥

೧೪೦೧

ಬೇಡುವೆನೆ ದೇವೇಂದ್ರನ ಪದವಿಯನಿನ್ನು ?
ಮೂಡುವ ಸೂರ್ಯನ ಪ್ರಭೆಯಂತೆ ಓಡದಿರು.
ಓಡದಿರು ಎನ್ನ ಮುಂದೆ ಮಾಣಿಕ್ಯದ ಬೆಳಗಿನಂತೆ.
ನೋಡು, ಮಾತಾಡು.
ಕೃತಕದ ಪರಿಯ (ಪದವಿಯ?) ಬೇಡುವ,
ಲಿಂಗವೆನ್ನಲಿದ್ದುದೆ ಗುಹೇಶ್ವರಾ ? ॥೭೦೭॥

೧೪೦೨

ಬ್ರಹ್ಮಂಗೆ ದೂರುವೆನೆ ? ಸರಸ್ವತಿಯ ವಿಕಾರ.
ವಿಷ್ಣುವಿಂಗೆ ದೂರುವೆನೆ ? ಲಕ್ಷ್ಮಿಯ ವಿಕಾರ.
ರುದ್ರಂಗೆ ದೂರುವೆನೆ ? ದೇವಿಯ ವಿಕಾರ.
ಇನ್ನಾರಿಗೆ ದೂರುವೆ ಕಾಮನ ಹುಯ್ಯಲ ?
ಎಲ್ಲರೂ ತಮ್ಮ ತಮ್ಮ ಅವಸ್ಥೆಯ ಕಳೆಯಲಾರರು.
ಪರದೈವವೆಂಬಂತೆ ನಾನು ಹೇಳಾ ಗುಹೇಶ್ವರಾ ? ॥೭೦೪॥

೧೪೦೩

ಬ್ರಹ್ಮವ ನುಡಿದಾನು ಭ್ರಮಿತನಾದೆನಯ್ಯಾ,
ಅದ್ವೈತವ ನುಡಿದಾನು ಅಹಂಕಾರಿಯಾದೆನಯ್ಯಾ,
ಶೂನ್ಯವ ನುಡಿದಾನು ಸುಖದುಃಖಕ್ಕೆ ಗುರಿಯಾದೆನಯ್ಯಾ,
ಸ್ಥಲಗೆಟ್ಟು ನುಡಿದಾನು ಸಂಸಾರಿಯಾದೆನಯ್ಯಾ,
ಗುಹೇಶ್ವರಾ, ನಿಮ್ಮ ಶರಣ ಸಂಗನಬಸವಣ್ಣನ
ಪ್ರಸಾದವ ಕೊಂಡು ಬದುಕಿದೆನಯ್ಯಾ. ॥೭೦೯॥

೧೪೦೪

ಬ್ರಹ್ಮವಿಷ್ಣುಗಳ ಮಾಯೆ ತೊತ್ತಳದುಳಿವಂದು,
ರುದ್ರಗಣ ಪ್ರಮಥಗಣಂಗಳೆಂಬವರ
ಮಾಯೆ ಮರುಳ್ಮಾಡಿ ಕಾಡುವಂದು,
ನೊಸಲ ಕಣ್ಣು ಪಂಚಮುಖ ದಶಭುಜದವರಿಗೆ
ಮಾಯೆ ಅರ್ಧಾಂಗಿಯಾದಂದು,
ದೇವದಾನವರ ಮಾಯೆ ಅಗಿದಗಿದು ತಿಂಬಂದು,
ಅಷ್ಟಾಶೀತಿಸಹಸ್ರ ಋಷಿಗಳ
ಮಾಯೆ, ತಪೋಮದದಲ್ಲಿ ಕೆಡಹುವಂದು
ನಾನು ಮಾಯಾಕೋಲಾಹಲ (ನಿರ್ಮಾಯನೆಂಬ ಗಣೇಶ್ವರ?)ನಾಗಿರ್ದೆ
ಕಾಣಾ ಗುಹೇಶ್ವರಾ. ॥೭೧೦॥

೧೪೦೫

ಬ್ರಹ್ಮ ವಿಷ್ಣು ರುದ್ರ ಈಶ್ವರ ಸದಾಶಿವ ಪರಮೇಶ್ವರರೆಂಬ ಸಂದಣಿ
ತಲೆದೋರದ ಮುನ್ನ – ಅಲ್ಲಿಂದತ್ತ ಬಯಲೆ ಸ್ವರೂಪವಾಯಿತ್ತು.
ಆ ಸ್ವರೂಪಿನ ಘನತೆಯ ಉಪಮಿಸಬಾರದು.

ನೋಡಬಾರದ ಬೆಳಗು, ಕೂಡಬಾರದ ಮೂರ್ತಿ.
ಅಖಂಡ ಅಪ್ರತಿಮ ನಮ್ಮ ಗುಹೇಶ್ವರಲಿಂಗದ ಬೆಳ(ಬೆಡ?)ಗಿನ ಮೂಲವ
ಲಿಂಗಸಂಗಿಗಳಲ್ಲದೆ ಮಿಕ್ಕಿನ ಅಂಗವಿಕಾರಿಗಳೇನ ಬಲ್ಲರೊ ? ||೭೧೧||

೧೪೦೬

ಭಕ್ತ ಜಂಗಮದ ಷಟ್‌ಸ್ಥಲದ,
ಸಕೀಲ ಸಂಬಂಧವನಾರು ಬಲ್ಲರು ಹೇಳಾ
ಅದೇನು ಕಾರಣವೆಂದಡೆ:
ಹಸಿವುಳ್ಳವ ಭಕ್ತನಲ್ಲ
ವಿಷಯವುಳ್ಳವ ಮಹೇಶ್ವರನಲ್ಲ
ಆಸೆಯುಳ್ಳವ ಪ್ರಸಾದಿಯಲ್ಲ
ಜೀವಗುಣವುಳ್ಳವ ಪ್ರಾಣಲಿಂಗಿಯಲ್ಲ
ತನುಗುಣವುಳ್ಳವ ಶರಣನಲ್ಲ
ಜನನ-ಮರಣವುಳ್ಳವ ಐಕ್ಯನಲ್ಲ
ಈ ಆರರ ಅರಿವಿನ ಅರ್ಥದ, ಸಂಪತ್ತಿನ
ಭೋಗ ಹಿಂಗಿದರೆ, ಸ್ವಯಂ ಜಾತನೆಂಬೆ
ಆ ದೇಹ ನಿಜದೇಹವೆಂಬೆ
ಆ ದೇಹ ಗುರುಗುಹೇಶ್ವರನೆಂಬೆ. ||೭೧೨||

೧೪೦೭

ಭಕ್ತ-ಜಂಗಮದ ಸಕೀಲಸಂಬಂಧವನು ಆರು ಬಲ್ಲರು ಹೇಳಾ ?
ಅರ್ಥವನೊಪ್ಪಿಸಿದಾತ ಭಕ್ತನಲ್ಲ. ಪ್ರಾಣವನೊಪ್ಪಿಸಿದಾತ ಭಕ್ತನಲ್ಲ.
ಅಭಿಮಾನವನೊಪ್ಪಿಸಿದಾತ ಭಕ್ತನಲ್ಲ.
ಅದೇನು ಕಾರಣವೆಂದಡೆ– ಸತ್ಯಸದಾಚಾರಕ್ಕೆ ಸಲ್ಲನಾಗಿ.
ಆ ಭಕ್ತನ ಮನೆಯ ಹೊಕ್ಕು– ಪಾದಾರ್ಚನೆಯ ಮಾಡಿಸಿಕೊಂಡು
ಒಡಲ ಕುಕ್ಕಲತೆಗೆ ಅಶನವನುಂಡು. ವ್ಯಸನದ ಕಕ್ಕುಲತೆಗೆ ಹಣವ ಬೇಡಿ.
ಕೊಟ್ಟಡೆ ಕೊಂಡಾಡಿ ಕೊಡದಿರ್ದಡೆ ದೂರಿಕೊಂಡು ಹೋಹಾತ ಜಂಗಮವಲ್ಲ.
ಆದಿ ಅನಾದಿಯಿಂದಲತ್ತತ್ತ ಮುನ್ನಲಾದ. ಮಹಾಘನವ ಭೇದಿಸಿ ಕಂಡು ಅರಿದು
ಕಾಯದ ಜೀವದ ಹೊಲಿಗೆಯ ಬಿಚ್ಚಿ ಬೀಸಾಡಿ. ತನ್ನನೆ ಅರ್ಚಿಸಿ ಇರಬಲ್ಲಾತ ಭಕ್ತ.
ಸುಳುಹಿನ ಸೂತಕ ಮೈದೋರದೆ. ಒಡಲ ಕಳವಳದ ರುಚಿಗೆ ಹಾರೈಸದೆ.
ಅರಿವೆ ಅಂಗವಾಗಿ ಆಪ್ಯಾಯನವೆ ಭಕ್ತಿಯಾಗಿ. ಕಿಂಕುರ್ವಾಣವೆಂಬ ಶಿವಮಂತ್ರಕ್ಕೆ

ನಮೋ ನಮೋ ಎನಬಲ್ಲಡೆ ಆತ ಜಂಗಮ.
ಆ ಜಂಗಮದ ಆ ಭಕ್ತನ ಸಮ್ಮೇಳವೆ ಸಮ್ಮೇಳ.
ಮಿಕ್ಕಿನ ಅರೆಭಕ್ತರ ಒಡತಣ ಸಂಗ
ನಮ್ಮ ಗುಹೇಶ್ವರಲಿಂಗಕ್ಕೆ ಸೊಗಸದು. ॥೭೧೩॥

೧೪೦೮

ಭಕ್ತನಾಧೀನವಾಗಿ ಭಕ್ತಿಯ ಬೇಡ ಬಂದವನಲ್ಲ.
ಮುಕ್ತಿಯಾಧೀನವಾಗಿ ಮುಕ್ತಿಯ ಬೇಡಬಂದವನಲ್ಲ.
ಅಶನಾತುರನಾಗಿ ವಿಷಯವ ಬಯಸಿ ಬಂದವನಲ್ಲ.
ಗುಹೇಶ್ವರನ ಶರಣ ಸಂಗನಬಸವಣ್ಣ
ಮಾಡುವ ಭಕ್ತನಲ್ಲಾಗಿ, ನಾನು ಬೇಡುವ ಜಂಗಮವಲ್ಲ, ಕಾಣಾ,
ಚೆನ್ನಬಸವಣ್ಣಾ. ॥೭೧೪॥

೧೪೦೯

ಭಕ್ತನಿದ್ದ ಠಾವಿಂಗೆ ಕರ್ತ ಬಂದಡೆ.
ಅತ್ತಿತ್ತ ಹರಿಯದೆ ನಂಬಬೇಕು ನೋಡಾ.
ಕರ್ತನ ಕಂಡು ಭೃತ್ಯ ಉರಿಯನುಗುಳಿದಡೆ
ಬಳಿಕ ಈ ಕರ್ತನ [ಭೃತ್ಯ] ಭಾವಕ್ಕೆ ಸಂಬಂಧವೇನು ?
ತಪ್ಪಿ ತಪ್ಪಿ ತಿದ್ದಿಕೊಂಡೆಹೆನೆಂದಡೆ ಹಸನಾಗಬಲ್ಲುದೆ ?
ಗುಹೇಶ್ವರನ ಶರಣನಾರೆಂಬುದನು ನೀನೆತ್ತ ಬಲ್ಲೆ ? ಹೋಗಾ,
ಮರುಳ ಸಿದ್ಧರಾಮಯ್ಯಾ. ॥೭೧೫॥

೧೪೧೦

ಭಕ್ತನೆಂದಲ್ಲಿ ದೃಷ್ಟವಾಯಿತ್ತು; ಐಕ್ಯನೆಂದಲ್ಲಿ ನಷ್ಟವಾಯಿತ್ತು.
ಈ ನಷ್ಟ ದೃಷ್ಟವನೊಳಗೊಂಡು ಅದೃಶ್ಯವಾಗಿಪ್ಪ
ಅಖಂಡಗುಹೇಶ್ವರನ ನಿಲವ ಉಪಮಿಸಬಾರದೆ
ನಿಶ್ಶಬ್ದಿಯಾದೆನು. ॥೭೧೬॥

೧೪೧೧

ಭಕ್ತ, ಪ್ರಸಾದವ ಕೊಂಡು ಪ್ರಸಾದವಾದ
ಪ್ರಸಾದ, ಭಕ್ತನ ನುಂಗಿ ಭಕ್ತನಾಯಿತ್ತು.

ಭಕ್ತನೂ ಪ್ರಸಾದವು ಏಕಾರ್ಥವಾಗಿ – ಲಿಂಗಸಂಗವ ಮರೆದು,
ಭಕ್ತನೆ ಭವಿಯಾದ, ಪ್ರಸಾದವೆ ಓಗರವಾಯಿತ್ತು.
ಮತ್ತೆ ಆ ಓಗರವೆ ಭವಿ. ಭವಿಯೆ ಓಗರವಾಯಿತ್ತು.
ಓಗರ ಭವಿ ಎಂಬೆರಡೂ ಇಲ್ಲದೆ
ಓಗರವೆ ಆಯಿತ್ತು ಗುಹೇಶ್ವರಾ. ॥೭೧೭॥

೧೪೧೨

ಭಕ್ತ ಭಕ್ತನೆಂದೇನು ? ಭವಿಗಳ ಮನೆಯಲುಳ್ಳನ್ನಬರ ಭಕ್ತನೆ ?
ಭಕ್ತ ಭಕ್ತನೆಂದೇನು ? ಜಾತಿ ವರ್ಣಾಶ್ರಮ ಕುಲ ಗೋತ್ರ ನಾಮ ಸೀಮೆಯೆಂಬ
ಷಡುಭ್ರಮೆ ಕಣ್ಣಲ್ಲಿ ಕವಿದು ಓಲಾಡುವನ್ನಬರ ಭಕ್ತನೆ ?
ಭಕ್ತ ಭಕ್ತನೆಂದೇನು ? ಪಂಚಸೂತಕವುಳ್ಳನ್ನಬರ ಭಕ್ತನೆ ?
ಭಕ್ತ ಭಕ್ತನೆಂದೇನು ? ತನುವಂಚಕ, ಮನವಂಚಕ ಧನವಂಚಕ ಭಕ್ತನೆ ?
ಅಲ್ಲಲ್ಲ ನಿಲ್ಲು ಮಾಣು, –
ಇವರು ಸಾವಿಂಗೆ ಸಂಬಳಗುಂಡನಿರಿದು ಕೊಂಬವರು,
ಭಕ್ತರಪ್ಪರೆ ಗುಹೇಶ್ವರಾ ? ॥೭೧೮॥

೧೪೧೩

ಭಕ್ತ ಭಕ್ತನೆಂದೇನೊ ? ಭವಿಗಳು ಮನೆಯಲುಳ್ಳನ್ನಕ್ಕ ಭಕ್ತನೆ ?
ಭಕ್ತ ಭಕ್ತನೆಂದೇನೊ ? ಅನ್ಯದೈವ ಸುರೆ ಮಾಂಸವುಳ್ಳನ್ನಕ್ಕ ಭಕ್ತನೆ ?
ಭಕ್ತ ಭಕ್ತನೆಂದೇನೊ ? ಹರಕೆ ತೀರ್ಥಯಾತ್ರೆಯುಳ್ಳನ್ನಕ್ಕ ಭಕ್ತನೆ ?
ಭಕ್ತ ಭಕ್ತನೆಂದೇನೊ ? ತನು ಮನ ಧನ ವಂಚನೆಯುಳ್ಳನ್ನಕ್ಕ ಭಕ್ತನೆ ?
ಇವರೆಲ್ಲರು ಎದೆಯಲ್ಲಿ ಕಲ್ಲನಿರಿಸಿಕೊಂಡು
ಸಾವಿಂಗೆ ಸಂಬಳಿಗರು ಕಾಣಾ ಗುಹೇಶ್ವರಾ. ॥೭೧೯॥

೧೪೧೪

ಭಕ್ತ ಮಾಡಿಹನೆಂಬಿರಿ, ಭಕ್ತ ಮಾಡಿಹನೆಂಬಿರಿ; –
ಭಕ್ತ ಮಾಡಿಹನೆಂದು ಗೆಗ್ಗೆವಾಯ್ದುಕೊಳ್ಳಲಾಗದು.
ಅದೇಕೆಂದಡೆ:
ಭಕ್ತನು ಅಸ್ತಿ ನಾಸ್ತಿ ಅರಿಯದನ್ನಕ್ಕ, ಉಂಟು ಇಲ್ಲವೆಂದು ತಿಳಿಯದನ್ನಕ್ಕ
ಮಾಡಿತ್ತೇ ಗೆಲ್ಲ ಎಂದುಕೊಂಡಡೆ ಆ ಸುಳುಹಿಂಗೆ ಭಂಗ.
ತೂಳವೆತ್ತಿದಾತನು ಇರಿದುಕೊಂಬುದು.
ಭೂತದ ಗುಣವಲ್ಲದೆ ವೀರದ ಗುಣವಲ್ಲ.

ಸ್ವೇಚ್ಛಾತುರದ ಮಾಟವೊ ? ಮುಕ್ತ್ಯಾತುರದ ಮಾಟವೊ ?
ರಿಣಾತುರದ ಮಾಟವೊ ? – ಎಂಬುದ ತಿಳಿಯಬೇಕಲ್ಲದೆ
ಕೊಂಡುದೆ ಕೋಳಾಗಿ ಹೋಹನ್ನಕ್ಕರ ಜಂಗಮಲಕ್ಷಣವಲ್ಲ.
ತುಂಬಿದ ಬಂಡಿಯು ಹಾರವನರಿದು ನಡೆಸುವನ
ಜಾಣಿಕೆಯಂತಿರಬೇಡಾ ಲಿಂಗಜಾಣರು ?
ಸ್ವೇಚ್ಛಾತುರವನಾಚರಿಸುವ ಜಂಗಮಕ್ಕೆ ಭವಂ ನಾಸ್ತಿ
ಮುಕ್ತ್ಯಾತುರವನಾಚರಿಸುವ ಜಂಗಮಕ್ಕೆ ಭವ ಹಿಂಗದು.
ರಿಣಾತುರವನಾಚರಿಸುವ ಜಂಗಮಕ್ಕೆ ಯಮದಂಡನೆ.
ಹರಿದು ಬರಲಿ ಕಿತ್ತು ಬರಲಿ ಅವನೇನಾದರೂ ಆಗಲಿ
ನಾನು ತೆಕ್ಕೊಂಡು ಹೋದೆನೆಂಬನ್ನಕ್ಕರ ಜಂಗಮಲಕ್ಷಣವಲ್ಲ.–
ಜಂಗಮ ಕರುಣರಸಭರಿತನಾಗಿ,
ಭಕ್ತನಲ್ಲಿ ಜಂಗಮದಲ್ಲಿ ಭಾವಭೇದವಿಲ್ಲಾಗಿ.
ಇಂತೀ ಕ್ರಮಾದಿಕ್ರಮಂಗಳನರಿದು ಸುಳಿಯದಿದ್ದಡೆ
ನಿರ್ವಯಲಸ್ಥಲಕ್ಕೆ ದೂರ ಕಾಣಾ ಗುಹೇಶ್ವರಾ. ॥೭೨೦॥

೧೪೧೫

ಭಕ್ತರ ಮನೆಯೊಳಗೆ ಮನೆಕಟ್ಟಿಕೊಂಡಿಪ್ಪ ಜಂಗಮದ ಇಂಗಿತಾಕಾರವೆಂತೆಂದಡೆ
ಆ ಭಕ್ತನ ತನುಮನದೆಡೆಯಲ್ಲಿ ಮೋಹಿತನಾಗದೆ,
ಹೋಹ, ಬಾಹ, ಭಕ್ತ ಜಂಗಮಕ್ಕೆ ಮಾಡುವ ದಾಸೋಹ ನೋಡಿ.
ಅವರಿಗೆ ಮಾಡುವಡೆ ಎನಗೆ ಮಾಡುವ ಭಕ್ತಿಯೆಂದು ಇದ್ದ ಪರಿಯಲ್ಲಿ ಸುಖಿಸಿ.
ಬಂದ ಪರಿಯಲ್ಲಿ ಪರಿಣಾಮಿಸಿ,
ನಿಷ್ಕಾಮ್ಯ, ನಿಸ್ಪೃಹ, ನಿರ್ದೋಷಿಯಾಗಿ,
ಕೋಪ ತಾಪವಿಲ್ಲದೆ ಭಕ್ತಿ ಜ್ಞಾನಯುಕ್ತನಾಗಿ
ಆ ಭಕ್ತನ ನಡೆ ನುಡಿಯಲ್ಲಿ ಜಡ ಹುಟ್ಟಿದರೆ ಅದಲ್ಲವೆಂದು ಕಳೆದು.
ಸತ್ಯದ ಬುದ್ಧಿಗಲಿಸಿ ಸಂತೈಸಿಕೊಂಡು ಇಹುದೆ ಜಂಗಮಲಕ್ಷಣ.
ಅಂಥ ಜಂಗಮನೆ ಪ್ರಾಣವಾಗಿ.
ಅದರಾಜ್ಞೆಯ ಮೀರದೆ
ಮನವಚನಕಾಯದಲ್ಲಿ ಉದಾಸೀನವಿಲ್ಲದೆ.
ಅವರ ಕೂಡಿಕೊಂಡು ದಾಸೋಹವ ಮಾಡುವುದೆ ಭಕ್ತನ ಲಕ್ಷಣವು.
ಈ ಎರಡಕ್ಕೂ ಭವಂ ನಾಸ್ತಿಯಹುದು.
ಇಂತಪ್ಪ ಭಕ್ತ ಜಂಗಮದ ಸಕೀಲಸಂಬಂಧವ
ಬಸವಣ್ಣ ಮೆಚ್ಚುವನು ಕಾಣಾ ಗುಹೇಶ್ವರಾ. ॥೭೨೧॥

೧೪೧೬

ಭಕ್ತಿಭಾವದ ಭಜನೆ ಎಂತಿದ್ದುದಂತೆ ಅಂತರಂಗದಲ್ಲಿ ಅರಿವು.
ಆ ಅಂತರಂಗದಲ್ಲಿ ಅರಿವಿಂಗೆ ಆಚಾರವೆ ಕಾಯ.
ಆ ಆಚಾರಕಾಯವಿಲ್ಲದೆ ಅರಿವಿಂಗಾಶ್ರಯವಿಲ್ಲ.
ಅರಿವು ಆಚಾರದಲ್ಲಿ ಸಮವೇಧಿಸಿದ ಲಿಂಗೈಕ್ಯ.
ಕ್ರಿಯಾಬದ್ಧನೆಂದು ನುಡಿದಡೆ ಪಂಚಮಹಾಪಾತಕ.
ನಿನ್ನ ಅರಿವಿಂಗಬ್ಜಾಗಿ ಆಚಾರಕ್ಕೆ ಆಳಾಗಿ
ನಮ್ಮ ಗುಹೇಶ್ವರಲಿಂಗ ನಿನ್ನ ಕೈವಶಕ್ಕೊಳಗಾದನು.
ನಿನ್ನ ಸುಖಸಮಾಧಿಯ ತೋರು ಬಾರಾ ಸಿದ್ಧರಾಮಯ್ಯಾ. ॥೭೨೨॥

೧೪೧೭

ಭಕ್ತಿಯನಾರು ಬಲ್ಲರು ? ಬಲ್ಲವರನಾರನೂ ಕಾಣೆ.
ತನ್ನ ಮರೆದು ಇದಿರ ಹರಿದು ಇರಬಲ್ಲಡೆ ಆತ ಭಕ್ತ .
ಆ ಭಕ್ತಂಗೆ ಶಿವನೊಲಿವ.
ನುಡಿಯಲ್ಲಿ ಭಕ್ತಿಯನಾಡಿ ನಡೆಯಲ್ಲಿ ಇಲ್ಲದಿದ್ದಡೆ
ಕಡೆಮುಟ್ಟೆ ಶಿವನೊಲಿವುದು ಹುಸಿ.
ಮರೆದು ಕೋಪದುರಿಯನುಗುಳಿ
ಅರಿದು ಬಂದೆರಗಿದೆನೆಂಬ ನುಡಿಗೆ
ಒಲಿವನೆ ನಮ್ಮ ಗುಹೇಶ್ವರಲಿಂಗವು ? ॥೭೨೩॥

೧೪೧೮

ಭಕ್ತಿಯೆ ಒಗರವಾಗಿ, ಸತ್ಯವೆ ಮೇಲೋಗರವಾಗಿ
ನಿಜತತ್ವವೆ ಸವಿಯಾಗಿ –
ಗುಹೇಶ್ವರಲಿಂಗಕ್ಕೆ ಇಕ್ಕಬಲ್ಲವ
ಸಂಗನಬಸವಣ್ಣನಲ್ಲದಿಲ್ಲ. ॥೭೨೪॥

೧೪೧೯

ಭಕ್ತಿಯೆಂಬ ಸಮಾಧಾನ ಬಸವಣ್ಣನಿಂದ ಎನಗಾಯಿತ್ತು.
ಪ್ರಸಾದವೆಂಬ ಪರಿಣಾಮ ಮರುಳುಶಂಕರದೇವರಿಂದ ಎನಗಾಯಿತ್ತು.
ಏಕೋಭಾವದ ನಿಷ್ಠೆ ಸಿದ್ಧರಾಮಯ್ಯದೇವರಿಂದ ಎನಗಾಯಿತ್ತು.
ಸರ್ವಜೀವ ಪರಿಪೂರ್ಣಕಳೆ ಚನ್ನಬಸವಣ್ಣನಿಂದ ಎನಗಾಯಿತ್ತು.
ಆದ (ಅದರ?) ನಿಜದ ನೆಲೆ ಗುಹೇಶ್ವರಲಿಂಗವೆಂಬ ನಾಮವಾಯಿತ್ತು. ॥೭೨೫॥

೧೪೨೦

ಭರಿತಭೋಜನ ಭರಿತಭೋಜನ ಎಂದು,
ಭ್ರಮೆಗೊಂಡಿತ್ತು ಲೋಕವೆಲ್ಲ.
ಭರಿತಭೋಜನವೆ ದಿಟವಾದಡೆ ಮರ್ತ್ಯದಲ್ಲಿ ಸುಳಿಯಲುಂಟೆ ?
ಚತುರ್ವಿಧ ಅರ್ಪಿತದೊಳಗೆ, ಆವುದು ಭರಿತ ಎಂಬುದನರಿಯರಾಗಿ,
ಗುಹೇಶ್ವರಲಿಂಗದಲ್ಲಿ ಭರಿತಭೋಜನದ ಅನು,
ಚನ್ನಬಸವಣ್ಣಂಗಾಯಿತ್ತು ! ॥೭೨೬॥

೧೪೨೧

ಭಾವಕ್ಕೆ ಪೂಜ್ಯನಲ್ಲ,
ಬಹಿರಂಗದೊಳಗಡಗಿತ್ತೆಂದಡೆ ಕ್ರಿಯಾಶಬ್ದನಲ್ಲ.
ಅರಿವಿನೊಳಗಡಗಿತ್ತೆಂದಡೆ ಮತಿಗೆ ಹವಣಲ್ಲ.
ಭಾವ ನಿರ್ಭಾವ ನಿಶ್ಶೂನ್ಯವನು ಕಾಬ ಪರಿಯಿನ್ನೆಂತು ಹೇಳಾ?
ಅದ ಕಂಡು, ತನ್ನೊಳಗಿಂಬಿಟ್ಟುಕೊಂಬ ಪರಿಯೆಂತು ಹೇಳಾ,
ನಮ್ಮ ಗುಹೇಶ್ವರಲಿಂಗದಲ್ಲಿ, ಸಂಗನಬಸವಣ್ಣಾ ? ॥೭೨೭॥

೧೪೨೨

ಭಾವಗೆಟ್ಟು ಭವನಷ್ಟನು ಒಡಹುಟ್ಟಿದ ಐವರ ಕೈಬಿಟ್ಟನು.
ಭಂಡನು ಲಜ್ಜೆಭಂಡನು, ಕಂಡಡೆ ನುಡಿಸದಿರಾ ಮಾಯಾದೇವಿ.
ಅರಿವೆಯ (ಅರಿವ?)ನುಟ್ಟು ನೆರೆ ಮರುಳಾದನು
ಹುಟ್ಟ ಮುರಿದನು ಮಡಕೆಯನೊಡೆದನು
ಆದಿ ಪುರಾತನು ಅಚಲ ಲಿಂಗೈಕ್ಯನು.
ಗುಹೇಶ್ವರನಲ್ಲಯ್ಯಂಗೆ ಮೂಗಿಲ್ಲ ಮಗಳೆ. ॥೭೨೮॥

೧೪೨೩

ಭಾವದಲ್ಲಿ ಸಿಲುಕಿದ ಲಿಂಗಕ್ಕೆ ಪ್ರಳಯವದ್ಭುತ ಕಾಣರೆ !
ಅದ ಪ್ರಾಣಲಿಂಗವೆಂತೆಂಬೆ ? ಲಿಂಗಪ್ರಾಣವೆಂತೆಂಬೆ ?
'ಗುಹೇಶ್ವರ' 'ಗುಹೇಶ್ವರ' ಎಂದೆಂಬ ಲಿಂಗವು
ನಿಂದಲ್ಲಿಯೆ ನಿಂದಿತ್ತು. ॥೭೨೯॥

೧೪೨೪

ಭಾವ ಸದ್ಭಾವ ನಿರ್ಭಾವವೆಂಬ ತ್ರಿಪುಟಿಭಾವವಾವುದೆಂದಡೆ:
ಜಡವಹ ತನ್ನನ್ನು ಅಜಡವಹ ಮನಸ್ಸಿನಿಂದಲೆ •

ತದೇಕ ನಿಷ್ಠೆಯಿಂದ ಭಾವಿಸೂದೀಗ ಭಾವವು.
ಸದ್ಭಾವವೆಂದಡೆ:
ಜಡವಾಗಿ ದೃಶ್ಯವಲ್ಲದ ಅಜಡವಾಗಿ ಅದೃಶ್ಯವಲ್ಲದ
ಜಡಾಜಡ ಸಮ್ಮಿಶ್ರವಲ್ಲದ ಭಾವವ ಭಾವಿಸೂದೆ ಸದ್ಭಾವವು.
ನಿರ್ಭಾವವೆಂದಡೆ: ಭಾವ ಸದ್ಭಾವವೆರಡಳಿದು
ವಾಚಿಕ ಅವಾಚಿಕವಾಗಿಹುದಾಗಿ ನಿರ್ಭಾವವು.
ಇಂತೀ ಭಾವ ಸದ್ಭಾವ ನಿರ್ಭಾವವೆಂಬ
ತ್ರಿಪುಟಿಭಾವವಳಿದುಳಿದ ಮಹಾಘನವು ತಾನೆ;
ಶ್ರೀಗುರುವಾದ, ಲಿಂಗವಾದ, ಜಂಗಮವಾದ.
ಇಂತೀ ತ್ರಿವಿಧದ ಪಾದೋದಕ ಪ್ರಸಾದದಲ್ಲಿ
ಪರಿಣಾಮಿ ಗುಹೇಶ್ವರಾ ನಿಮ್ಮ ಶರಣ. ॥ ೭೩೦॥

೧೪೨೫

ಭಾವಿ(ವು?)ಕರಿಗೆ ಮೂರ್ತಿಯ ಆರಾಧನೆ ಸಂಸಾರಕ್ಕೆ ಬೀಜ,
ಲಿಂಗಾರಾಧನೆ ಭವಕ್ಕೆ ಬೀಜ.
ಲಿಂಗಸ್ವಾಯತ ಜಂಗಮವೆ ಪ್ರಾಣಲಿಂಗ.
ಇದು ಕಾರಣ–ಗುಹೇಶ್ವರಾ
ಸಂಗನಬಸವಣ್ಣನ ಮರೆಯ ಹೊಕ್ಕು ಬದುಕಿದೆನು. ॥ ೭೩೧॥

೧೪೨೬

ಭಾವಿಸಿ ದೃಷ್ಟಿನಟ್ಟು ಸ್ವೈವೆರಗಾಗಿದ್ದುದ ಕಂಡೆ,
ಕಲ್ಪಿಸಿ ದೃಷ್ಟಿನಟ್ಟು ಸ್ವೈವೆರಗಾಯಿತ್ತಯ್ಯಾ.
ಗುಹೇಶ್ವರಾ, ನಿಮ್ಮಲ್ಲಿ ಸರ್ವನಿರ್ವಾಣಿ ಸಂಗನಬಸವಣ್ಣ.
ಎನ್ನ ಪ್ರಾಣಲಿಂಗವೆಂದರಿದು ಕಂಡೆನಿಂದು. ॥ ೭೩೨॥

೧೪೨೭

ಭಾವಿಸಿ ನೋಡಿಹೆನೆಂಬುದೆಲ್ಲವು ಭ್ರಮೆ,
ಅದು ತಾ ಮುನ್ನಿನಂತೆ ಇದ್ದಿತ್ತು.
ಮುಂದೆ ಭಾವಿಸಬೇಡ ಕೂಡಬೇಡ,
ಕೂಡಿಹೆನೆಂಬ ಭಾವ ಮುನ್ನವೆ ಬೇಡ ಗುಹೇಶ್ವರಾ. ॥ ೭೩೩॥

೧೪೨೮

ಭೂತವೈದರಿಂದ ಸ್ಥೂಲ ತನು.
ಮನ ಬುದ್ಧಿ ಚಿತ್ತ ಅಹಂಕಾರದಿಂದ ಸೂಕ್ಷ್ಮತನು.

ಭಾವಜ್ಞಾನದಿಂದ ಕಾರಣತನು. – ಈ ತ್ರಿವಿಧವು ಚೈತನ್ಯವಿಡಿದ ಕಾರಣ.
ಭೂತ ಅಂತಃಕರಣ ಭಾವ ಜ್ಞಾನಕ್ಕೆ ಸ್ವತಂತ್ರತೆಯಿಲ್ಲ.
ಆ ಚೈತನ್ಯಕ್ಕೆ ಶರೀರಭಾವವಿಲ್ಲದಿರ್ದಡೆ ತೋರಿಕೆ ಇಲ್ಲವಾಗಿ
ಆ ಚೈತನ್ಯವೆ ತನ್ನ ಲೀಲೆಯಿಂದ ಶರಣನೆನಿಸಿತ್ತು.
ಆ ಶರಣನ ಪಂಚಭೌತಿಕ ತನುವ ಇಷ್ಟಲಿಂಗ ಇಂಬುಗೊಂಡಿಹ ಕಾರಣ,
ಕಾಯ ಪಂಚಬ್ರಹ್ಮಮಯವಾಯಿತ್ತು.
ಅಂತಃಕರಣ[ವ] ಅಂತಃಪ್ರೇರಕ ಪ್ರಾಣಚೈತನ್ಯಲಿಂಗವೊಳಕೊಂಡ ಕಾರಣ
ಶರಣನ ಕರಣಂಗಳೆ ಲಿಂಗಕಿರಣಂಗಳಾದವು.
ಭಾವ ಜ್ಞಾನವೆಡೆಗೊಂಡು [ಲಿಂಗ] ತೃಪ್ತಿಸ್ವರೂಪದಿಂದ
ಆನಂದಮಯವಪ್ಪ ಕಾರಣ.
ಶರಣ ಸಚ್ಚಿನ್ಮಯನಾದ – ಇದು ಕಾರಣ.
ಗುಹೇಶ್ವರಾ ನಿಮ್ಮ ಶರಣರ ದೃಷ್ಟಲಿಂಗವೆಂಬೆ ! ॥೭೩೪॥

೧೪೨೯

ಭೂಮಿ ನಿನ್ನದಲ್ಲ ಹೇಮ ನಿನ್ನದಲ್ಲ ಕಾಮಿನಿ ನಿನ್ನವಳಲ್ಲ –
ಅವು ಜಗಕ್ಕಿಕ್ಕಿದ ವಿಧಿ.
ನಿನ್ನ ಒಡವೆ ಎಂಬುದು ಜ್ಞಾನರತ್ನ.
ಅಂತಪ್ಪ ದಿವ್ಯರತ್ನವ ಕೆಡಗುಡದೆ
ಆ ರತ್ನವ ನೀನು ಅಲಂಕರಿಸಿದೆಯಾದಡೆ
ನಮ್ಮ ಗುಹೇಶ್ವರಲಿಂಗದಲ್ಲಿ
ನಿನ್ನಿಂದ ಬಿಟ್ಟು ಸಿರಿವಂತರಿಲ್ಲ ಕಾಣಾ ಎಲೆ ಮನವೆ. ॥೭೩೫॥

೧೪೩೦

ಭೂಮಿಯಲ್ಲಿ ಹುಟ್ಟಿ ಅಂತರಂಗದಲ್ಲಿ ಬೆಳೆವ ಫಲವೃಕ್ಷದಂತೆ.
ಸರ್ವರಿಗೆ ಭೂತಹಿತವಾಗಿ ಫಲರಸವನೀವಂತೆ.
ನೀ ಭೂಮಿಯಾಗಿ ನಾ ಸಸಿಯಾಗಿ ಬೆಳೆದ ಬೆಂಬಳಿಯಲ್ಲಿ
ಗುಹೇಶ್ವರಲಿಂಗವೆಂಬುದು ಫಲವಾಯಿತ್ತು.
ಅರಿದ ಅರಿಕೆ ರಸವಾಯಿತ್ತು.
ಸಂಗನಬಸವಣ್ಣನಿಂದ ಎನ್ನಂಗ ಬಯಲಾಯಿತ್ತು ! ॥೭೩೬॥

೧೪೩೧

ಭೂವಳಯ ಮಧ್ಯದ ಎಂಟೆಸಳ ಪದ್ಮದ ಮೇಲೆ
ಸುಳಿವನ ಎಚ್ಚರಲೀಯ.

ಕಂಟಕ ವಿರಹಿತನು, ನಂಟರಿಗೆ ವಿರೋಧಿಸಿ, ಇಳೆಯ ಗುಣ ರಹಿತನು,
ಗಗನಕಮಲಕುಸುಮ ಪರಿಣಾಮದೊಳಗೆ ಪರಿಣಾಮಿ ನೋಡಾ !
ತಾನೆಂಬುದ ಹುಸಿ ಮಾಡಿ, ಲಿಂಗಜಂಗಮ ದಿಟವೆಂದು
ಸಕಲ ಸುಖಭೋಗಂಗಳನರ್ಪಿಸಿದ.
ಗುಹೇಶ್ವರಾ [ಅದು], ನಿಮ್ಮ ಶರಣ ಬಸವಣ್ಣಂಗಲ್ಲದೆ
ಇನ್ನಾರಿಗೂ ಅಳವಡದು. ॥೭೩೭॥

೧೪೩೨

ಮಂಡೆ ಮರ..............ಹರಿದು ಹೊರಳಿದಡೆ,
ದಂಡೆಯ ಕಟ್ಟಿದ ಗಂಡ ನಗೆಗೆಡೆಯಾದಡೆ,
ಗೌರಿ ರಂಡೆ ಕಾಣಾ ಗುಹೇಶ್ವರಾ. ॥೭೩೮॥

೧೪೩೩

ಮಂತ್ರವ ಕಲಿತಡೇನು ?
ಪುರಶ್ಚರಣೆಯ ಮಾಡಿದಲ್ಲದೆ ಸಿದ್ಧಿಸದು.
ಮದ್ದನರಿದು ಫಲವೇನು ?
ಪ್ರಯೋಗಿಸಿಕೊಂಡಲ್ಲದೆ ಮಾಣದು.
ಲಿಂಗವನರಿದಡೇನು ?
ನೆನೆದಲ್ಲದೆ ಸಿದ್ಧಿಸದು ಕಾಣಾ ಗುಹೇಶ್ವರಾ. ॥೭೩೯॥

೧೪೩೪

ಮಠವೇಕೋ ಪರ್ವತವೇಕೋ ಜನವೇಕೋ ನಿರ್ಜನವೇಕೋ
ಚಿತ್ತ ಸಮಾಧಾನವುಳ್ಳ ಶರಣಂಗೆ ?
ಮತ್ತೆ – ಹೊರಗಣ ಚಿಂತೆ ಧ್ಯಾನ್ಯ ಮೌನ ಜಪತಪವೇಕೊ;
ತನ್ನ ತಾನರಿದ ಶರಣಂಗೆ ಗುಹೇಶ್ವರಾ ? ॥೭೪೦॥

೧೪೩೫

ಮಣಿಯನೆಣಿಸಿ ಕಾಲವ ಕಳೆಯಬೇಡ.
ಕಣೆಯ ಪೂಜಿಸಿ ದಿನವ ಕಳೆಯಬೇಡ.
ಕ್ಷಣವಾದಡೆಯೂ ಆಗಲಿ ನಿಜದ ನೆನಹೆ ಸಾಕು.
ಬೆಂಕಿಯಲುಳ್ಳ ಗುಣ ಬಿಸಿನೀರಲುಂಟೆ ಗುಹೇಶ್ವರಾ ? ॥೭೪೧॥

೧೪೩೬

ಮಣ್ಣಿಲ್ಲದ ಹಾಳಿನ ಮೇಲೆ
ಕಣ್ಣಿಲ್ಲದ ಕುರುಡನೊಂದು ರತ್ನವ ಕಂಡ.
ಕೈಯಿಲ್ಲದವ ತಕ್ಕೊಂಡ, ಕೊರಳಿಲ್ಲದವ ಧರಿಸಿಕೊಂಡ.
ಗಂಡನಿಲ್ಲದ ಬಾಲೆ ಆರು ಮಕ್ಕಳ ಹಡೆದು,
ಗುಹೇಶ್ವರನೆಂಬಂತರತೊಟ್ಟಿಲ ಕಟ್ಟಿ, ತಾಯಿಯೆದ್ದು ಆಡುವಾಗ
ಮಗನೆದ್ದು ಮೊಲೆಯ ಕೊಡುತಿರ್ದ.
ಆದ ಕಂಡು ಬೆರಗಾದ ನಮ್ಮ ಗುಹೇಶ್ವರನು. ॥ ೭೪೨॥

೧೪೩೭

ಮತಿಯೊಳಗೆ ದುರ್ಮತಿ ಹುಟ್ಟಿ, ಕಲಿ ಗಸಣಿಗೊಳಗಾದ ಪರಿಯ ನೋಡಾ !
ಜ್ಞಾನವನು ಅಜ್ಞಾನ ಬಂದು ನುಂಗಿದಡೆ,
ಭಾನು ಗ್ರಹಣಕ್ಕೆ ಒಳಗಾದಂತೆ ಆದುದಲ್ಲಾ !
ಕ್ಷೀರವುಳ್ಳ ಪಶು ಕರುವನಗಲಿ ಅರಿಯದ ಮೋಹದಂತಿದ್ದುದಲ್ಲಾ.
ಹೇಳುವಲ್ಲಿ ಯುಕ್ತ ಕೇಳುವಲ್ಲಿ ಮುಕ್ತನೆಂಬುದೆಲ್ಲವೂ,
ಅಜ್ಞಾನಭಾವಕ್ಕೆ ಬಂದುದಲ್ಲಾ !
ನೀರ ಮೇಲಣ ಲಿಪಿಯ ಓದಬಲ್ಲವರುಂಟೆ ? ಸಾರಾಯ ವೇದ್ಯರಿಗಲ್ಲದೆ ?
ಕನ್ನಡಿಯೊಳಗೆ ನೋಡೆ ಭಿನ್ನವಿದ್ದುದೆ ಅಯ್ಯಾ ?
ತನ್ನಕಣ್ಣಿಂಗೆ ಕಾಣದಂತೆ ಇದ್ದಿತ್ತು
ದರ್ಪಣದೊಳಗಣ ಬೆಳಗು.
ಬೆಳಗಿನೊಳಗಣ ಬೆಳಗು,
ಗುಹೇಶ್ವರನಿಪ್ಪೆಡೆಯ ತಿಳಿದು ನೋಡಿರೆ ! ॥೭೪೩॥

೧೪೩೮

ಮಥನದ ಲೀಲೆಯಲ್ಲಿ ಹುಟ್ಟುವುದೇ ಬ್ರಹ್ಮವು ?
ಶ್ರುತಿ ಸ್ಮೃತಿಗಳಿಗೆ ಅಳವಡದು ನೋಡಾ !
ಪೃಥ್ವಿಯೊಳಗಿಲ್ಲದ ಅಚಲವಪ್ಪ ಘನವನು,
ಸಚರಾಚರದಲ್ಲಿ ಭರಿತವೆಂತೆಂಬೆ ?
ಇಲ್ಲದ ಲಿಂಗವನಲ್ಲಲ್ಲಿಗೆ ಉಂಟುಮಾಡುವ
ಈ ಲೀಲೆಯ ವಾರ್ತೆ ಎಲ್ಲಿಯದೊ ಗುಹೇಶ್ವರಾ ? ॥೭೪೪॥

೧೪೩೯

ಮನ ಉಂಟೆ ಮರುಳೆ ಶಿವಯೋಗಿಗೆ ?
ಮತ್ತೊಂದು ಮನಮಗ್ನ ಉಂಟೆ ಶಿವಯೋಗಿಗೆ ?

ಇಲ್ಲದ ಮನವ ಉಂಟೆಂದು ನುಡಿದು, ಅಡಗಿಸಿದೆನೆಂಬ ಮಾತು
ಮನವ ನೆಲೆಮಾಡಿ ತೋರುತ್ತದೆ.
ಗುಹೇಶ್ವರನ ಅರಿದ ಶರಣಂಗೆ
ತೋರಲಿಲ್ಲ ಅಡಗಲಿಲ್ಲ ಕೇಳಾ. ॥೭೪೫॥

೧೪೪೦

ಮನಕ್ಕೆ ಮನ ಏಕಾರ್ಥವಾಗಿ, ಕಾಯಕ್ಕೆ ಕಾಯ ಸಮದರ್ಶನವಾಗಿ
ಪ್ರಾಣಕ್ಕೆ ಪ್ರಾಣ ಸಮಕಳೆಯಾಗಿ ಇದ್ದವರಲ್ಲಿ –
ಮನ ವಚನ ಕಾಯದಲ್ಲಿ ಶಬ್ದಸೂತಕ ಹುಟ್ಟಿದಡೆ
ಸೈರಿಸಬಾರದು ಕೇಳಾ.
ನಮ್ಮ ಗುಹೇಶ್ವರಲಿಂಗದಲ್ಲಿ ನೀನು ಭಕ್ತನಾದ ಕಾರಣ,
ಮುಳಿಸು ಮೊಳೆದೋರಿತ್ತು ಕಾಣಾ ಸಂಗನಬಸವಣ್ಣಾ. ॥೭೪೬॥

೧೪೪೧

ಮನಮಗ್ನವೆಂತಿರ್ಪುದು ಅಂತೆ ಇರಬೇಕಲ್ಲದೆ
ಮತ್ತೊಂದು ಮನವೆಂಬುದುಂಟೆ ಹೇಳಾ ?
ಅರಿದು ಮರೆದುದ ಅರಿದು ನುಡಿದು
ಮರೆದೆನೆಂಬ ಜ್ಞಾನ (ಅಜ್ಞಾನ?) ವುಂಟೆ ?
ಗುಹೇಶ್ವರಲಿಂಗವು ನೆರೆ ಅರಿದೆನೆಂಬಲ್ಲಿ
ಮನವ ಮರೆಮಾಡಿ ಕಾಡುವನು. ॥೭೪೭॥

೧೪೪೨

ಮನ ಮನ ಒಂದಾಗಿ ಅರಿವು ಸಯವಾದ ಬಳಿಕ
ಕೊಂಡಾಡಲಿಕ್ಕೆ ಇಂಬುಂಟೆ ಹೇಳಾ ? ಶಬ್ದಕ್ಕೆ ತೆರಹಿಲ್ಲ !
ಗುಹೇಶ್ವರಲಿಂಗದಲ್ಲಿ ಬೆರಸಿ, ಬೇರಿಲ್ಲ ಕಾಣಾ ಸಂಗನಬಸವಣ್ಣಾ. ॥೭೪೮॥

೧೪೪೩

ಮನ ಮನ ಒಂದಾಗಿ ತನು ತನು ಒಂದಾಗಿ ಬೆರಸಿದ ಬಳಿಕ,
ಕರೆಯಲಿಲ್ಲ ಕಾಲುವಿಡಿಯಲಿಲ್ಲ ಎಂದು ಅರಿದವರು,
ಉಪಚರಿಸಿ ಬರಹೇಳಿದಡೆ ಅದೆ ಕೊರತೆ ನೋಡಾ !
ಅಂಗದ ಕೈಯಲ್ಲಿ ಕ್ರೀ ಇರಲು ಮಾತಿನಲ್ಲಿ ಅದ್ವೈತವೆಂತಪ್ಪುದೊ ?
ಆಗಾಗದ ಮುನ್ನವೆ ತಾನಾದೆನೆಂಬವರಲ್ಲಿಗೆ
ನಮ್ಮ ಗುಹೇಶ್ವರಲಿಂಗವು ಅಡಿಯಿಡುವನಲ್ಲ. ॥೭೪೯॥

೧೪೪೪

ಮನ ಮನವ (ಘನವ?) ಬೆರಸಿದನುಭಾವ
ಘನಕ್ಕೆ ಘನ ಒಂದಾಯಿತ್ತು ನೋಡಾ !
ಅದು ತನ್ನಲ್ಲಿ ತಾನು ತೃಪ್ತಿಯಾದ ನಿಜವು (ನಿಲವು?)
ನಿರ್ಣಯದ ಮೇಲೆ ನಿರ್ಧಾರವಾಯಿತ್ತು ನೋಡಾ.
ಗುಹೇಶ್ವರಲಿಂಗದಲ್ಲಿ,
ಚನ್ನಬಸವಣ್ಣನಿಂದ ಸುಖಿಯಾದೆನು. ॥ ೭೫೦॥

೧೪೪೫

ಮನ ಮನ ಬೆರಸಿದವರೆಂತಿಪ್ಪರಂತಿಪ್ಪರು.
ಅವರ ಪರಿಯನರಿಯಬಾರದು ಕೇಳಾ.
ಇದಿರಿಟ್ಟೆಯರಿಯದಿಪ್ಪರು.
ಒಳಗೆ ನೋಡಿದರೆ ಬಟ್ಟಬಯಲಲ್ಲಿಪ್ಪರು.
ಗುಹೇಶ್ವರನ ಶರಣರು ತಾವಿಲ್ಲದ ಮಹಿಮರೆಂಬುದ
ನಿನ್ನಿಂದಲರಿದೆ ನೋಡಾ ಸಿದ್ಧರಾಮಯ್ಯಾ. ॥೭೫೧॥

೧೪೪೬

ಮನ ಮನ ಬೆರಸಿ ಸಮರತಿಯ ಸಂಗದಲ್ಲಿ ಸುಖಿಗಳಾಗಿಪ್ಪ
ಶರಣರ ಸಂಗಸುಖವನು ಆ ಶರಣರೆ ಬಲ್ಲರಲ್ಲದೆ
ಕೆಲದಲ್ಲಿದ್ದವರಿಗೆ ಅರಿಯಬಹುದೆ ?
ನಿಜಗುಣಭರಿತ ಶಿವಶರಣರ ನಿಲವ
ಕಂಡಿಹೆನೆಂದಡೆ ಕಾಣಬಹುದೆ ? ॥೭೫೨॥

೧೪೪೭

ಮನ ಮುಕ್ತಿ ವಿವೇಕವೆಂಬ ಅಕ್ಕಿಯನು ಗುಪಿತವೆಂಬ ಒರಳೊಳಗಿಕ್ಕಿ
ಅಭಿನ್ನಮಥನವೆಂಬ ಒನಕೆಯಲ್ಲಿ ಥಳಿಸಿ ಕಲ್ಮಷವೆಂಬ ತೌಡ ಹಾರಿಸಿ.
ಸಮತೆಯೆಂಬ ಸಲಿಲದಲ್ಲಿ ಜಾಳಿಸಿ, ಅಳುಪು ಎಂಬ ಹರಳ ಕಳೆದು
ದಯಾಮೃತವೆಂಬ ಹಾಲಿನಲ್ಲಿ ಬೋನವ ಮಾಡಿ
ಸಮರಸ ರುಚಿಕರದಿಂದ ಶಾಕಪಾಕಂಗಳಂ ಮಾಡಿ
ನೆನಹಿನ ಲವಲವಕೆಯೆ ಅಭಿಗಾರವಾಗಿ
ನಿರ್ಮಲವೆಂಬ ಶಿವದಾನವ ಗಡಣಿಸಿ ಕಾಯ್ದಿದ್ದರಯ್ಯಾ.
ಪಂಚೇಂದ್ರಿಯವೆಂಬ ಸೊಣಗ ಮುಟ್ಟದಂತೆ ಕಾಯ್ದಿದ್ದರಯ್ಯಾ.
ಷಡುವರ್ಗವೆಂಬ ತೊತ್ತಿರು ಮುಟ್ಟದಂತೆ ಕಾಯ್ದಿದ್ದರಯ್ಯಾ.

ಅಷ್ಟಮದವೆಂಬ ಮಕ್ಕಳು ಮುಟ್ಟದಂತೆ ಕಾಯ್ದಿದ್ದರಯ್ಯಾ.
ಇನಿತು ಮುಖ್ಯವಾದ ಹೀನಂಗಳಾವೂ ಮುಟ್ಟದಂತೆ ಕಾಯ್ದಿದ್ದರಾಗಿ,
ಈ ಬೋನ ಗುಹೇಶ್ವರಲಿಂಗಕ್ಕೆ ಅರ್ಪಿತವಾಯಿತ್ತು, ಕಾಣಾ
ಚೆನ್ನಬಸವಣ್ಣಾ. ॥೭೫೩॥

೧೪೪೮

ಮನವ ತೊಳೆದು ನಿರ್ಮಲವ ಮಾಡಿಹೆನೆಂಬ ಯೋಗವೆಂತುಟೊ ?
ಮನವ ಹಿಡಿದು ತಡೆದಿಹೆನೆಂಬವರ
ಮರುಳುಮಾಡಿ ಕಾಡಿತ್ತು, ನೋಡಾ ಮನವು !
ಮನ ವಿಕಲ್ಪಜ್ಞಾನದಿಂದರಿದು,
ಅದ ಶುದ್ಧವ ಮಾಡಿಹೆನೆಂಬುದು ತಾನೆ ಮನ ನೋಡಾ.
ನಮ್ಮ ಗುಹೇಶ್ವರಲಿಂಗದ ಅನುವನರಿದಿಹೆನೆಂಬವರು,
ಮನವಿಲ್ಲದಿರಬೇಕು ನೋಡಾ ಸಿದ್ಧರಾಮಯ್ಯಾ. ॥೭೫೪॥

೧೪೪೯

ಮನವ ಮರೆದು ಮಾಡಿದಡೆ ಲಿಂಗರೂಪವಾಯಿತ್ತು.
ಧನವ ಮರೆದು ಮಾಡಿದಡೆ ಜಂಗಮರೂಪವಾಯಿತ್ತು.
ತನುವ ಮರೆದು ಮಾಡಿದಡೆ ಪ್ರಸಾದರೂಪವಾಯಿತ್ತು.
ಇಂತೀ ತ್ರಿವಿಧವನರಿದು ಮಾಡಿದಡೆ ಬಯಲು ರೂಪವಾಯಿತ್ತು.
ಮನವನರಿಯನಾಗಿ, ಲಿಂಗವನರಿತ.
ಧನವನರಿಯನಾಗಿ ಜಂಗಮವನರಿತ.
ತನುವನರಿಯನಾಗಿ ಪ್ರಸಾದವನರಿತ –
ಈ ತ್ರಿವಿಧಸುಖವ ಮರೆದನಾಗಿ ಬಯಲೆಂದರಿತ.
ಮನವ ಲಿಂಗ ಒಳಕೊಂಡಿತ್ತು.
ಧನವ ಜಂಗಮ ಒಳಕೊಂಡಿತ್ತು.
ತನುವ ಪ್ರಸಾದ ಒಳಕೊಂಡಿತ್ತು.
ಇಂತೀ ತ್ರಿವಿಧರೂಪವನು ಬಯಲು ಒಳಕೊಂಡಿತ್ತು ಗುಹೇಶ್ವರಾ. ॥೭೫೫॥

೧೪೫೦

ಮನ ಸಂದಲ್ಲಿ ಬೇರೊಂದು ನೆನಹುಂಟೆ ?
ನೆನಹು ನಿಷ್ಪತಿಯಾದಲ್ಲಿ ಉಭಯವೆಂಬುದಕ್ಕೆ ಒಡಲಿಲ್ಲ,
ಅದು ಸಲ್ಲದ ನೇಮ.
ಗುಹೇಶ್ವರಲಿಂಗ ಅಲ್ಲಿ ಇಲ್ಲವೆಂಬುದಕ್ಕೆ
ಅದೇ ಕುರುಹು. ॥ ೭೫೬ ॥

೧೪೫೧

ಮನಸುಖವನರಿಯನಾಗಿ ಲಿಂಗವೆಂದರಿದನು.
ಧನಸುಖವನರಿಯನಾಗಿ ಜಂಗಮವೆಂದರಿದನು.
ತನುಸುಖವನರಿಯನಾಗಿ ಪ್ರಸಾದವೆಂದರಿದನು.
ಗುಹೇಶ್ವರಾ ನಿಮ್ಮ ಶರಣ ಸಂಗನಬಸವಣ್ಣ
ಸ್ವಯಲಿಂಗವಾದ ಕಾರಣ. ॥೭೫೭॥

೧೪೫೨

ಮರಹು ಬಂದಹುದೆಂದು ಶ್ರೀಗುರು ಕರಸ್ಥಲಕ್ಕೆ ಕುರುಹ ಕೊಟ್ಟಡೆ;
ಆ ಕುರುಹು ನೋಟದಲ್ಲಿ ಅಳಿದು,
ಆ ನೋಟ ಮನದಲ್ಲಿ ಅಳಿದು,
ಆ ಮನ ಭಾವದಲ್ಲಿ ಅಳಿದು,
ಆ ಭಾವ ಜ್ಞಾನದಲ್ಲಿ ಅಳಿದು,
ಆ ಜ್ಞಾನ ಸಮರಸದಲ್ಲಿ ಅಳಿದ ಬಳಿಕ–
ಇನ್ನು ಅರಿವ ಕುರುಹಾವುದು ಹೇಳಾ ?
ನೀನರಸುವ ಕುರುಹು ಎನ್ನ ಕರಸ್ಥಲದ ಲಿಂಗ,
ಎನ್ನ ಕರಸ್ಥಲ ಸಹಿತ ನಾನು ನಿನ್ನೊಳಗೆ ನಿರ್ವಯಲಾದೆ.
ಎನ್ನ ನಿರ್ವಯಲಲಿಂಗ ನಿನಗೆ ಸಾಧ್ಯವಾಯಿತ್ತಾಗಿ;
ನೀನೇ ಪರಿಪೂರ್ಣನಯ್ಯಾ.
ನಿನ್ನಲ್ಲಿ ಮಹಾಲಿಂಗವು ಸಾಧ್ಯವಾಗಿ ಅದೆ.
ಗುಹೇಶ್ವರ ಸಾಕ್ಷಿಯಾಗಿ,
ನೀ ಬಯಸುವ ಬಯಕೆ ಸಂದಿತ್ತು ಕಾಣಾ ಸಂಗನಬಸವಣ್ಣಾ. ॥೭೫೮॥

೧೪೫೩

ಮರ್ತ್ಯಲೋಕದ ಕವಿಗಳೆಲ್ಲರೂ ಎನ್ನ ತೊತ್ತಿನ ಮಕ್ಕಳು.
ದೇವಲೋಕದ ಕವಿಗಳೆಲ್ಲರೂ ಎನ್ನ ಕರುಣದ ಕಂದಗಳು
ಹಿಂದೆ ಮುಂದೆ ಆಡುವ ಕವಿಗಳೆಲ್ಲರೂ ಲೆಂಕ ಡಿಂಗರಿಗರು
ಹರಿ ಬ್ರಹ್ಮ ರುದ್ರ ಈ ಮೂವರೂ ಎನ್ನ ಕಕ್ಷೆಯ ಒಕ್ಕಲು
ಗುಹೇಶ್ವರಾ ನೀ ಮಾವ ನಾನಳಿಯ. ॥೭೫೯॥

೧೪೫೪

ಮರ್ತ್ಯಲೋಕದ ಮಹಾಮನೆ ಹಾಳಾಗಿ ಹೋಗಬಾರದೆಂದು
ಕರ್ತನಟ್ಟಿದನಯ್ಯಾ ಒಬ್ಬ ಶರಣನ !

ಆ ಶರಣ ಬಂದು ಕಲ್ಯಾಣವೆಂಬ ಶಿವಪುರವ ಕೈಲಾಸವ ಮಾಡಿ
ರುದ್ರಗಣ ಪ್ರಮಥಗಣಂಗಳೆಲ್ಲರ ಹಿಡಿತಂದು
ಅಮರಗಣಂಗಳೆಂದು ಹೆಸರಿಟ್ಟು ಕರೆದು,
ಅಗಣಿತಗಣಂಗಳೆಲ್ಲರ ಹಿಡಿತಂದು,
ಅಸಂಖ್ಯಾತರೆಂಬ ಹೆಸರಿಟ್ಟು ಕರೆದು,
ಭಕ್ತಿಯ ಕುಳಸ್ಥಲವ ಶ್ರುತದೃಷ್ಟಪವಾಡದಿಂದ ಮರೆದು ತೋರಿ,
ಜಗವರಿಯಲು ಶಿವಾಚಾರವ ಧ್ವಜವನೆತ್ತಿಸಿ
ಮರ್ತ್ಯಲೋಕ ಶಿವಲೋಕವೆರಡಕ್ಕೆ ನಿಚ್ಚಣಿಗೆಯಾದನು.
ಆ ಶಿವಶರಣನ ಮನೆಯೊಳಗಿಪ್ಪ ಶಿವಗಣಂಗಳ ತಿಂಥಿಣಿಯ ಕಂಡು,
ಎನ್ನ ಮನ ಉಬ್ಬಿಕೊಬ್ಬಿ ಓಲಾಡುತ್ತಿದ್ದೆನಯ್ಯಾ !
ನಮ್ಮ ಗುಹೇಶ್ವರನ ಶರಣ ಸಂಗನಬಸವಣ್ಣನ
ದಾಸೋಹದ ಘನವನೇನೆಂದೆನಬಹುದು ನೋಡಾ ಸಿದ್ಧರಾಮಯ್ಯಾ. ॥೭೬೦॥

೧೪೫೫

ಮುಸಿಯಿಲ್ಲದ ಗೂಡಿನೊಳಗೆ
ಹೊಸಬಣ್ಣದ ಪಕ್ಷಿಯ ಗೂಡನೈದೆ ಭಸ್ಮವ ಮಾಡಿ ನುಂಗಿ,
ಶಿಶು ತಾಯ ಬೆಸಲಾಗಲಾ ತಾಯಿ ಶಿಶುವನೆ ನುಂಗಲಾ ಶಿಶು
ಕೋಪದಿಂದಲಾ ತಾಯ ಐದೆ ನುಂಗಿ,
ಹೊಸ ದೇಶದಿಂದೊಬ್ಬನಾರಯ್ಯ ಬಂದಾತ ಪೆಸರಿಲ್ಲದಂತಿಪ್ಪರನೈದೆ ನುಂಗಿ,
ಬಸವ ಚೆನ್ನಬಸವ ಅನುಮಿಷ ಗುಹೇಶ್ವರ ಸಹಿತವಾಗಿ
ಶಿಶುವಿನ ಕರಸ್ಥಲದಲ್ಲಿ ಸುಖಿಯಾದರು. ॥೭೬೧॥

೧೪೫೬

ಮಹಾಘನವೆ ತಾನಾದ ಬಳಿಕ ಪುಣ್ಯವಿಲ್ಲ, ಪಾಪವಿಲ್ಲ;
ಸುಖವಿಲ್ಲ, ದುಃಖವಿಲ್ಲ;
ಕಾಲವಿಲ್ಲ, ಕರ್ಮವಿಲ್ಲ;
ಜನನವಿಲ್ಲ, ಮರಣವಿಲ್ಲ;
ಗುಹೇಶ್ವರಾ ನಿಮ್ಮ ಶರಣಂಗೆ ! ಆತ ಮಹಾಮಹಿಮ ನೋಡಯ್ಯಾ. ॥೭೬೨॥

೧೪೫೭

ಮಹಾಜ್ಞಾನದೊಳಗೆ ಪರಮಾನಂದ ನಿಜಬಿಂದು.
ಆ ನಿಜದೊಳಗೆ ಪರಮಾಮೃತ ತುಂಬಿ.

ಮೊದಲ ಕಟ್ಟೆಯೊಡೆದು ನಡುವಳ ಕಟ್ಟೆಯನಾಂತುದು,
ಮೊದಲ ಕಟ್ಟೆಯು, ನಡುವಳ ಕಟ್ಟೆಯು ಒಡೆದು,
ಕಡೆಯ ಕಟ್ಟೆಯನಾಂತುದು,
ಮೊದಲ ಕಟ್ಟೆಯು, ನಡುವಳ ಕಟ್ಟೆಯು,
ಕಡೆಯ ಕಟ್ಟೆಯು ಕೂಡಿ ಕಟ್ಟೆ ಕಟ್ಟೆಯನಾಂತುದು.
ಈ ಮೂರು ಕಟ್ಟೆಯೊಡೆದ ಮಹಾಜಲವನು ಪರಮ ಪದವಾಂತುದು.
ಆ ಪರಮ ಪದದಲ್ಲಿ ಎರಗಿ,
ನಾನು ಪಾದೋದಕ ಸಂಬಂಧಿಯಾಗಿ,
ಎನ್ನ ನಾನರಿಯದಾದೆ ಕಾಣಾ ಗುಹೇಶ್ವರಾ. ॥೭೬೩॥

೧೪೫೮

ಮಹಾಲಿಂಗಕ್ಕೆ ಮಜ್ಜನವೆಂದರೇನು ?
ಪರಿಮಳದ ಲಿಂಗಕ್ಕೆ ಪತ್ರಿಪುಷ್ಪವೆಂದರೇನು ?
ಜಗಜ್ಯೋತಿ ಲಿಂಗಕ್ಕೆ ದೀಪಾರತಿ ಎಂದರೇನು ?
ಅಮೃತಲಿಂಗಕಾರೋಗಣೆ ಎಂದರೇನು ?
ಗುಹೇಶ್ವರಲಿಂಗದಂತುವ ಬಲ್ಲವರಾರೊ ? ॥೭೬೪॥

೧೪೫೯

ಮಾಡಿ ಮಾಟವ ಮರೆದು, ಕೂಡಿ ಕೂಟವ ಮರೆದು,
ಬಯಲ ಸಮರಸದೊಳಗೆ ಬಯಲ ಬಯಲಾಗಿಪ್ಪವರಾರು ಹೇಳಾ
ಬಸವಣ್ಣನಲ್ಲದೆ ?
ತನ್ನ [ಅ?] ಭಿನ್ನವ ಮಾಡಿ ಅನ್ಯವೇನೂ ಇಲ್ಲದೆ
ತನ್ನ ತಾ ಮರೆದಿಪ್ಪವರಾರು ಹೇಳಾ
ಬಸವಣ್ಣನಲ್ಲದೆ ?
ಗುಹೇಶ್ವರಾ ನಿಮ್ಮ ಶರಣ ಸಂಗಬಸವಣ್ಣನ ನಿಲವಿಂಗೆ
ನಮೋ ನಮೋ ಎಂಬೆನು. ॥೭೬೫॥

೧೪೬೦

ಮಾಡಿಹೆ ಮಾಡಿಹೆನೆಂಬನ್ನಬರ
ತನ್ನ ಅವಧಿಗೆ ಬಂದುದನು ಅರಿವ ಪರಿ ಇನ್ನೆಂತೊ ?
ಅಗಸ ನೀರಡಿಸಿ ನಿಂದಂತೆ ಆಗಬೇಡ ಮಾರಯ್ಯಾ,
ಗುಹೇಶ್ವರಲಿಂಗವ ಅರಿವುದಕ್ಕೆ. ॥ ೭೬೬॥

೧೪೬೧

ಮಾಡುವ ಭಕ್ತನಲ್ಲಿ ಕೂಡಿಪ್ಪ ಜಂಗಮವು.
ಖೋಡಿಗಳೆವುತ್ತಿಪ್ಪರು ಒಬ್ಬರನೊಬ್ಬರು,
ತಮ್ಮವರ ತಾವರಿಯದಖಂಡಿತರು.
ಒಡಲ ಗುಣಧರ್ಮದಿಂದ ಅನ್ನಾಸನ ಪಂಕ್ತಿಗೆ
ಹೋರುವವರಿಗೇಕೆ ಶಿವನ ವೇಷ ?
ಜಂಗಮವೆನಿಸಿಕೊಳ್ಳವೆ ಚರಾಚರವೆಲ್ಲವು ?
ಅರಸನ ಹೆಸರಿನಲ್ಲಿ ಕರೆಯಿಸಿಕೊಂಡ ಅನಾಮಿಕನಂತೆ
ನಾಮ ರೂಪ ಇರ್ದಡೇನಾಯಿತ್ತು ? ಅಲ್ಲಿ ಶಿವನಿಲ್ಲ !
ಎಲ್ಲಾ ಅವನಿಯಲ್ಲಿ ಹೇಮವಿಪ್ಪುದೆ ? ಇಪ್ಪುದೊಂದು ಠಾವಿನಲ್ಲಿ.
ಪರಮನ ವೇಷಕ್ಕೆ ತಕ್ಕ ಚರಿತ್ರವುಳ್ಳಲ್ಲಿ ಶಿವನಿಪ್ಪನು.
ಅದೆಂತೆಂದಡೆ :
'ಧಾರಯೇತ್ ಸಮತಾಕಂಥಾಂ ಕ್ಷಮಾಖ್ಯಾಂ ಭಸ್ಮಘುಟಿಕಾಂ ।
ದಯಾ ಕಮಂಡಲಮೇವ ಜ್ಞಾನದಂಡೋ ಮನೋಹರಃ ॥
ಭಿಕ್ಷಾಪಾತ್ರಂ ಚ ವೈರಾಗ್ಯಭಕ್ತಿಭಿಕ್ಷಾಂ ಚ ಯಾಚಯೇತ್ ॥' ಎಂದುದಾಗಿ
ಅರಿವಿನ ವೇಷವ ಜ್ಞಾನದಲ್ಲಿ ಧರಿಸಿ, ಕುರುಹಿನ ವೇಷವ ಅಂಗದಲ್ಲಿ ಧರಿಸಿ
'ಭಕ್ತಿಭಿಕ್ಷಾಂದೇಹಿ' ಆದ ಅರಿವುಮೂರ್ತಿಗೆ ವೇಷವು ತಾ ಬೇಡ,
ಗುಹೇಶ್ವರಲಿಂಗದ ಆಣತಿಯುಂಟಾಗಿ. ॥೭೬೭॥

೧೪೬೨

ಮಾಡುವ ಮಾಟದಿಂದವೆ ಬೇರೊಂದ ಅರಿಯಬೇಕು
ಅರಿವಿಂಗೆ ನೆಮ್ಮುಗೆ ಒಡಗೂಡಬೇಕು.
ಅರಿವಿಂಗೆ ನೆಮ್ಮುಗೆ ಒಡಗೂಡಿದ ಬಳಿಕ
ಬಯಲ ಭ್ರಮೆಯ ಕಳೆದು
ನಮ್ಮ ಗುಹೇಶ್ವರಲಿಂಗದಲ್ಲಿ ನಿಜಪದವನೆಯ್ದುವುದು ಮಾರಯ್ಯಾ. ॥೭೬೮॥

೧೪೬೩

ಮಾತೆಂಬುದು ಜ್ಯೋತಿರ್ಲಿಂಗ, ಸ್ವರವೆಂಬುದು ಪರತತ್ವ;
ತಾಳು ಓಷ್ಠಸಂಪುಟವೆಂಬುದು ನಾದಬಿಂದುಕಳಾತೀತ.
ಗುಹೇಶ್ವರನ ಶರಣರು
ನುಡಿದು ಸೂತಕಿಗಳಲ್ಲ ಕೇಳಾ ಮರುಳೆ. ॥೭೬೯॥

೧೪೬೪

ಮಾಯಾಮಂಜಿನ ಜಲ ಉಕ್ಕಿ ಸಂಸಾರಕ್ಕೆ ಬೀಜವಾಗಿ
ಘಟಾನುಘಟಿತರ ಲಯಜನನವ ತನ್ನೊಳಗೆ ಮಾಡಿಸಿ
ಕುಂಜರ ಬಂದು ಸಿಂಹಾಸನವ ಸೀಳಿದಂತೆ
ನಿನ್ನಂಗದಲ್ಲಿ ನಿನ್ನನೆ ಕೊಲುವುದಾಗಿ–
ರಂಜನೆಗೆ ಸಿಲುಕುಗೊಳಿಸಿ ಮಂಜಿನ ರಂಜಕನ ಮಾಡದ ಮುನ್ನ
ನಿರಂಜನನಾಗು ಕಂಡಾ ನೀನು !
ನೀನಂಜದೆ ನೆನೆ ಕಂಡಾ ಗುಹೇಶ್ವರನ. ॥೭೭೦॥

೧೪೬೫

ಮಿಂದು ದೇವರ ಪೂಜಿಸಿಹೆನೆಂಬ ಸಂದೇಹಿ ಮಾನವಾ ನೀ ಕೇಳಾ.
ಮೀಯದೆ ಮೀನು ? ಮೀಯದೆ ಮೊಸಳೆ ?
ತಾ ಮಿಂದು, ತನ್ನ ಮೀಯದನ್ನಕ್ಕರ
ಈ ಬೆಡಗಿನ ಮಾತ ಮೆಚ್ಚುವನೆ ನಮ್ಮ ಗುಹೇಶ್ವರ ? ॥೭೭೧॥

೧೪೬೬

ಮುಕ್ತಿಗೆ ಮುಖವಾಗಿ ಯುಕ್ತಿಗೆ ಹೊರಗಾಗಿ
ಅರಿವಿಂಗೆ ಅರಿವಾಗಿಪ್ಪ ಭೇದವು
ಎನಗೆ ಕಾಣಬಂದಿತ್ತು ನೋಡಾ.
ನಿನ್ನ ಒಳಗ ಒರೆದು ನೋಡಿದಡೆ,
ಒರೆದೊರೆಯಿಲ್ಲದ ಚಿನ್ನದ ಪರಿಮಳ ಎನ್ನ ಮನವನಾವರಿಸಿ
ಪರಮಸುಖದ ಪರಿಣಾಮವನು ಒಳಕೊಂಡಿತ್ತು ನೋಡಾ.
ಈ ಕುರುಹಿನ ಮೊಳೆಯ
ಬರಿಯ ಬಯಲಲ್ಲಿ ನಿಲಿಸಿ ನೋಡಿ ಕೂಡಾ,
ನಮ್ಮ ಗುಹೇಶ್ವರನ ಶರಣ ಅಜಗಣ್ಣನೊಳಗೆ
ನೀನು ನಿರಾಳಸಂಗಿಯಾಗಿ. ॥೭೭೨॥

೧೪೬೭

ಮುಕ್ತಿಗೆ ಮುಖವಾಗಿ ಯುಕ್ತಿಗೆ ಹೊರಗಾಗಿ
ಅರಿವಿಂಗೆ ಅರಿವಾಗಿಪ್ಪ ಭೇದ ಕಾಣಬಂದಿತ್ತು ನೋಡಾ !
ಅರಿವರಿತು ಮರಹು ನಷ್ಟವಾಗಿಪ್ಪುದು ನಿನ್ನಲ್ಲಿ ಸನ್ನಹಿತವಾಗಿತ್ತು.
ಗುಹೇಶ್ವರನ ಶರಣ ಅಜಗಣ್ಣನ ನಿಲವು
ಬಯಲ ಬೆರಸಿದ ಮರೀಚಿಯಂತಾಯಿತ್ತು.
ಬೆರಸಿ ನೋಡಾ ಬೇರಿಲ್ಲದೆ ! ॥೭೭೩॥

೧೪೭೮

ಮುಖಮಧ್ಯದಲ್ಲಿ ನೇತ್ರ,
ನೇತ್ರ ಮಧ್ಯದಲ್ಲಿ ಮನ,
ಮನೋ ಮಧ್ಯದಲ್ಲಿ ತಾನು ತಾನಲ್ಲದೆ,
ಮತ್ತೊಂದು ಸಾಕಾರವಿಲ್ಲದಂತಹುದು ತಾರಕಬ್ರಹ್ಮವು
ಗುಹೇಶ್ವರಾ. ||೭೭೪||

೧೪೭೯

ಮುಗಿಲನೆಚ್ಚ ಕೋಲು ಮುಗಿಲ ಮುಟ್ಟದೆ ಮರಳಿ ಬಿದ್ದಂತೆ,
ಏರಿ ಜಾರಿ ಬೀಳುವ ಪ್ರಾಣಿಗಳು ಅತ್ತಲಾರು ಬಲ್ಲರೊ ?
ಹೊನ್ನು ಹೆಣ್ಣು ಮಣ್ಣೆಂಬ ಬಲೆಯಲ್ಲಿ ಬಿದ್ದವರು ಅತ್ತಲಾರು ಬಲ್ಲರೊ ?
ಗುಹೇಶ್ವರಾ, ನಿಮ್ಮ ಬಂದಿವಿಡಿದು ಸಯಬಂದಿಯಾದೆನು ! ||೭೭೫||

೧೪೮೦

ಮುಟ್ಟದ ಮುನ್ನ ನರರು, ಸುರರು, ಕಿನ್ನರರು
ಮೊದಲಾದವರೆಲ್ಲರೂ ಪಿಂಡವೆಂಬ ಭಾಂಡದಲ್ಲಿ
ಅಡಗಿದರಾಗಿ
ನಾನವರ ರೂಪಿಸಬಲ್ಲೆ.
ದೇವಗಣ ಪ್ರಮಥಗಣ, ರುದ್ರಗಣಂಗಳೆಂಬವರೆಲ್ಲರೂ
ಬ್ರಹ್ಮಾಂಡವೆಂಬ ಭಾಂಡದಲ್ಲಿ ಅಡಗಿದರಾಗಿ,
ನಾನವರ ಭಾವಿಸಬಲ್ಲೆ.
ಸತ್ಯರು, ನಿತ್ಯರು, ಮುಕ್ತರೆಂಬ ಮಹಾಮಹಿಮರೆಲ್ಲರೂ
ಚಿದ್ಭಾಂಡವೆಂಬ ಭಾಂಡದಲ್ಲಿ ಅಡಗಿದರಾಗಿ,
ನಾನವರನರಿದು ಬಲ್ಲೆ.
ಇಂತೀ ತ್ರಿಭಾಂಡವನೊಳಕೊಂಡ ಆ ಅಖಂಡಿತದಿರವೆ
ತಾನೆಂದರಿದ ಲಿಂಗೈಕ್ಯನ ರೂಹಿಸಲಿಲ್ಲಾಗಿ,
ಭಾವಿಸಲಿಲ್ಲಾಗಿ, ಅರಿಯಲಿಲ್ಲ.
ಅರಿವೆ ತಾನೆಂದರಿದ ಬಳಿಕ, ಗುಹೇಶ್ವರನೆಂಬುದು
ಬಯಲು ನೋಡಾ ! ||೭೭೬||

೧೪೮೧

ಮುನ್ನ ಎಂತಾಯಿತ್ತು ? ಆಗದಡೆಂತಾಯಿತ್ತು ?
ತನ್ನ ತಾನು ಅರಸುತ್ತಿದ್ದಿತ್ತು.

ತನ್ನ ಬಚ್ಚಿಟ್ಟ ಬಯಕೆಯ ನಿಧಾನವ ಕಂಡು
ತಾನೆ ಮಹವೆಂದು ತಿಳಿದು ನೋಡಾ.
ಗುಹೇಶ್ವರಲಿಂಗ ತನ್ನುವ ತನ್ನಂತೆ ಮಾಡಿತ್ತು. ॥೭೭೭॥

೧೪೭೨

ಮುನಿಯದಿರಿ ಮುನಿಯದಿರಿ ನಿಮಗೊಂದು ಯುಕ್ತಿಯ ಹೇಳಿಹೆನು,
ಅದೆಂತೆಂದಡೆ:
ನೀವೆನ್ನ ವಂಶೀಭೂತರಾದ ಕಾರಣ–ನಿಮ್ಮ ಹೆಚ್ಚು ಕುಂದು ಎನ್ನದಾಗಿ,
ನಿಮ್ಮ ಅಸ್ತಿ ನಾಸ್ತಿ ಎನ್ನದಾಗಿ,
ನಿಮ್ಮ ಹಾನಿವೃದ್ಧಿ ಎನ್ನದಾಗಿ.
ಹಾವ ಹಡದವರು ಬೇಲಿಯ ಹೊಗುವರೆ ಹೋಹುದೆ ಅಯ್ಯಾ ?
ವ್ಯಾಧನು ಸೂಸಲ ಚೆಲ್ಲಿ ಜಂತ್ರವ ಹಣ್ಣಿ,
ಅಡಿಗಲ್ಲನೊಡ್ಡಿ ಹೋದಬಳಿಕ
ಸೂಸಲ ಕಂಪಿಗೆ ಹೆಗ್ಗಣ ಬಂದು ಬಿದ್ದಂತೆ ಬಿದ್ದಿರಲ್ಲಾ ಮಾಯದ ಬಲೆಯಲ್ಲಿ !
ಕೋಪವೆಂಬ ಅಡಗನೊಡ್ಡಿ ತಾಪವೆಂಬ ಅರೆಗಲ್ಲನಿರಿಸಿ
ಹುಸಿಯೆಂಬ ಮೀಟುಗವಣೆಯ ಜಂತ್ರಿಸಿ,
ಹೊನ್ನು ಹೆಣ್ಣು ಮಣ್ಣೆಂಬ ಅಡಿಗಲ್ಲನೊಡ್ಡಿ
ಕೆಡಹಿದನಲ್ಲಾ ನಿಷ್ಕರುಣಿ ಮುಕ್ಕಣ್ಣ ವ್ಯಾಧನು !
ಅದೆಂತೆಂದಡೆ, ಶಿವರಹಸ್ಯದಲ್ಲಿ:
"ನಿಸ್ಸಂಗತ್ವಂ ನಿರಾಭಾರೀ ನಿಸ್ಸೀಮಂ ನಿರುಪಾಧಿಕಂ ।
ನಿರ್ದೇಹಂ ನಿರ್ಮಲಂ ನಿತ್ಯಂ ಸತ್ಯಂ ಜಂಗಮಲಕ್ಷಣಂ ॥
ಇಂತೆಂಬ ಶ್ರುತ್ಯರ್ಥವ ಕೇಳದೆ,
ಜಂಗಮವಾಗಿ ಸುಳಿವ ಮರುಳುಗಳಿರಾ ಕೇಳಿರೆ,
ಇದಕ್ಕೆ ಮತ್ತೆಯೂ ಶ್ರುತಿ:
"ಸುಖಂ ಚ ಬಿಂದುಮಾತ್ರೇಣ ದುಃಖಂ ಪರ್ವತ ಏವ ಚ ।
ಹರಿಣೀಪಾದಮಾತ್ರೇಣ ಬಂಧನಂ ತು ಜಗತ್ರಯಂ ॥
ಇಂತೆಂಬ ಶ್ರುತಿಗೊಳಗಾಗದೆ ಹೊನ್ನು ಹೆಣ್ಣು ಮಣ್ಣನಾಸೆಯಂ ಬಿಟ್ಟು
ಕೋಪ ತಾಪಮಂ ಬಿಟ್ಟು,
ಭ್ರಾಂತು ಭ್ರಮೆಯಂ ಬಿಟ್ಟು
ಜಂಗಮವಾಗಬೇಕು ಕಾಣಿರೆ ಮರುಳುಗಳಿರಾ.
ಇಂತೀ ಷಡುಲೋಭದ ರುಚಿ ಹಿಂಗಿ ಜಂಗಮವಾದಲ್ಲದೆ
ಭವ ಹಿಂಗದು ಕಾಣಾ ಗುಹೇಶ್ವರಾ. ॥೭೭೮॥

೧೪೭೩

ಮುಸುರೆಯ ಮಡಕೆಯ ನೊಣ ಮುತ್ತಿಕೊಂಡಿಪ್ಪಂತೆ,
ಕಸವುಳ್ಳ ಹೊಲದಲ್ಲಿ ಪಶುಗಳು ನೆರೆದಿಪ್ಪಂತೆ,
ಅನ್ನ ಉದಕ ಹೊನ್ನು ವಸ್ತ್ರವುಳ್ಳ ದೊರೆಯ ಬಾಗಿಲಲ್ಲಿ
ಬಹುಭಾಷೆಯ ಹಿರಿಯರುಗಳು ನೆರೆದುಕೊಂಡಿಪ್ಪರು.
ಗುಹೇಶ್ವರಾ, ನಿಮ್ಮ ಶರಣರು ಆಶಾಪಾಶವಿರಹಿತರು ! ॥೭೯॥

೧೪೭೪

ಮೂರರ ಹೊಲಿಗೆಯ ಬಿಚ್ಚಿ ಆರ ಮಾಡಲರಿಯರು !
ಆರರ ತಿರುಳ ತೆಗೆದು ಒಂದರೊಳಗೆ ನಿಲಿಸಲರಿಯರು !
ಐದರ ಮುಸುಕ ತೆಗೆದು ಐದರ ಕಳೆಯ ಕೆಡಿಸಿ,
ಐದರ ನಿಲವನಡಗಿಸಿ ಮೂರುಸಂಕಲೆಯ ಕಳದು
ಮೂರರ ಮುದ್ರೆಯನೊಡದು ಒಂದುಮುಖವಾಗಿನಿಂದಲ್ಲದೆ
ಜಂಗಮವಾಗಲರಿಯರು ಕಾಣಾ ಗುಹೇಶ್ವರಾ. ॥೮೦॥

೧೪೭೫

ಮೂರುಲೋಕಕೊಂದು ಪುಷ್ಪ !
ಆ ಪುಷ್ಪದ ಬಂಡ ಉಣಬಂದ ತುಂಬಿಯು ನೋಡಾ !
ತುಂಬುತ್ತ ಕೆಡಹುತ್ತಲೈದಾವೆ ಅವು ತಮ್ಮ ಪೂರ್ವಜನ್ಮಂಗಳಿಗೆ !
ಅದಕ್ಕೆ ಇಕ್ಕಿದೆನು ಒರೆಯ,
ಕಟ್ಟಿದೆನು ತೊಡರ,
ಒಡದ ಬಿರುದು ಗುಹೇಶ್ವರಾ. ॥೮೧॥

೧೪೭೬

ಮೂರುಲೋಕದ ಧೀರೆ ನಿದ್ರಾಂಗನೆ,
ಎಲ್ಲರನೂ ಹಿಂಡಿ ಹೀರಿ ಪ್ರಾಣಾಕರ್ಷಣೆಯ ಮಾಡಿ,
ಕಟ್ಟಿ ಕೆಡಹಿದಳಲ್ಲಾ !
ಇವಳ ಗೆಲುವ ಧೀರನಾರುವನೂ ಕಾಣೆ
ಇವಳ ಬಾಣಕ್ಕೆ ಗುರಿಯಾಗಿ
ಏಳುತ್ತ ಬೀಳುತ್ತಲಿದ್ದರು ಎಲ್ಲರೂ–ಗುಹೇಶ್ವರಾ. ॥೮೨॥

೧೪೭೭

ಮೂಲ ಮಂತ್ರವ ಕರ್ಣದಲ್ಲಿ ಹೇಳಿ
ಶ್ರೀ ಗುರು ಶಿಷ್ಯನಂಗದ ಮೇಲೆ ಲಿಂಗ ಪ್ರತಿಷ್ಠೆಯ ಮಾಡಿದ ಬಳಿಕ
ತನುವಿನೊಳಗೆ ಲಿಂಗ ಬೇರಿಪ್ಪುದೆಂಬ
ವ್ರತಗೇಡಿಯ ಮಾತ ಕೇಳಲಾಗದು.
ಒಳಗಿಪ್ಪನೆ ಲಿಂಗದೇವನು ?
ಮಲಮೂತ್ರದ ಹೇಸಿಕೆಯೊಳಗೆ,
ಪ್ರಾಣವಿಪ್ಪುದಲ್ಲದೆ ಲಿಂಗವಿಪ್ಪುದೆ ?
ಆ ಪ್ರಾಣನ ತಂದು, ತನ್ನ ಇಷ್ಟಲಿಂಗದಲ್ಲಿರಿಸಿ
ನೆರೆಯಬಲ್ಲರೆ ಆತನೆ ಪ್ರಾಣಲಿಂಗಸಂಬಂಧಿ.
ಇಷ್ಟಿಲ್ಲದವರ ಮೆಚ್ಚುವನೆ ನಮ್ಮ ಗುಹೇಶ್ವರಲಿಂಗವು ? ॥೭೮೩॥

೧೪೭೮

ಮೃಡನೆ ನಿಮ್ಮ ಪುರಾತನರ ಕಾಣುತ್ತ,
ತಡೆಯದೆ ಇದಿರೆದ್ದು ಹೊಡೆವಡೆನಾಗಿ ಬಿಡದು ನಾಚಿಕೆ.
ಸುಡಲಿಕೆನ್ನ ನುಡಿಹ,
ಸಡಿಲದೆನ್ನ ಅಹಂಕಾರ ನೋಡಯ್ಯಾ.
ಬಡಮನದವನ ಜಡಿದು ನಡೆಸಯ್ಯಾ ಗುಹೇಶ್ವರಾ. ॥೭೮೪॥

೧೪೭೯

ಮೇರುಗಿರಿಗಳೆಲ್ಲವೂ ಪ್ರಮಥರೊಡವೆ.
ರಜತಗಿರಿಗಳೆಲ್ಲವೂ ಪುರಾತರೊಡವೆ.
ಚತುರ್ದಶ ಭುವನವೆಲ್ಲವೂ ಲಿಂಗದೊಡವೆ.
ಪೃಥ್ವಿ ಎಂಬುದು ಕರ್ತಾರನ ಕಮ್ಮಟ ಅಚ್ಚಿನ ಮೊಳೆ ಬಾಣಸದ ಮನೆ.
ತನುಮನಧನಂಗಳೆಲ್ಲವು ನಮ್ಮ ಗುಹೇಶ್ವರಲಿಂಗದ ಸೊಮ್ಮು.
ನೀನೇನ ಕೊಟ್ಟು ಭಕ್ತನಾದೆ ಹೇಳಾ ಬಸವಣ್ಣಾ ? ॥೭೮೫॥

೧೪೮೦

ಯುಕ್ತಿಯ ಕೇಳಿದಡೆ ಭಕ್ತಿಯ ತೋರಿದ.
ಭಕ್ತಿಯ ಕೇಳಿದಡೆ ಯುಕ್ತಿಯ ತೋರಿದ.
ನಿತ್ಯವ ಬೆಸಗೊಂಡಡೆ ಅತ್ತತ್ತಲೋಸರಿಸಿದ.
ಗುಹೇಶ್ವರನ ಶರಣ ಬಸವಣ್ಣ.
ಮರೆಗೆ ಮರೆಯನೊಡ್ಡಿ ಜಾರಿದನು.
ಬಸವಣ್ಣನ ಪರಿ ಎಂತು ಹೇಳಾ ಮಡಿವಾಳ ಮಾಚಯ್ಯಾ. ॥೭೮೬॥

೧೪೮೧

ಯುಗದ ಉತ್ಸಾಹವ (ಉತ್ಸವವ?) ನೋಡಿರೆ !
ಪಂಚಶಕ್ತಿಗಳಿಗೆ ಪಂಚಪ್ರಧಾನರು.
ಅವರ ಆಗುಹೋಗನು ಆ ಶರಣನೆ ಬಲ್ಲ.
ಆ ಶರಣನು ತಾನು ತಾನಾಗಿ ಆರು ದರುಶನಕ್ಕೆ ಯಾಚಕನಲ್ಲ !
ಮೂರು ದರುಶನಕ್ಕೆ ಮುಯ್ಯಾನುವನಲ್ಲ,
ವೇದ ಶಾಸ್ತ್ರಾಗಮ ಪುರಾಣ ಛಂದಸ್ಸು,
ನಿಘಂಟುಗಳೆಂಬುವಕ್ಕೆ ಭೇದಕನಲ್ಲ,
ಅದೆಂತೆಂದಡೆ: ಅವರ ಅಂಗದ ಮೇಲೆ ಗುರುವಿಲ್ಲ ಲಿಂಗವಿಲ್ಲ ಜಂಗಮವಿಲ್ಲ.
ಪ್ರಸಾದವಿಲ್ಲ ಪಾದೋದಕವಿಲ್ಲದ ಭಾಷೆ.
ಆ ಗುರು ಲಿಂಗ ಜಂಗಮ ಪ್ರಸಾದ ಪಾದೋದಕ ಏಕಾರ್ಥವಾದ ಕಾರಣ
ಪ್ರಾಣಿಗಳೆಲ್ಲವು ಪ್ರಣಾಮಂಗೆಯ್ಯುತ್ತಿದ್ದವು,
ಜೀವಿಗಳೆಲ್ಲವು ಜಯ ಜೀಯಾ ಎನುತ್ತಿದ್ದುವು.
ಆತ್ಮಂಗಳೆಲ್ಲ ಅನುವ ಬೇಡುತ್ತಿದ್ದವು.
ಗುಹೇಶ್ವರಾ ಸಂಗನಬಸವಣ್ಣನ ಪಾದಕ್ಕೆ
ಈರೇಳುಭುವನವೆಲ್ಲವೂ ಜಯ ಜೀಯಾ ಎನುತ್ತಿದ್ದವು. ॥೭೮೭॥

೧೪೮೨

ಯೋಗದಾಗೆಂಬುದ ಮುನ್ನವೆ ಹೊದ್ದದ ಯೋಗಿಯೆ ಶಿವಯೋಗಿ
ಮೂಗ ಕಂಡ ಕನಸಿನ ಸ್ನೇಹದಂತೆ,
ಮುಗ್ಧೆಯ ಮನಹರುಷದ ರತಿಯಂತೆ, ಸಂಧಾನದಂತೆ;
ನಡು ಬಟ್ಟೆಯ ಮೂರು ನಡೆಗಳಲ್ಲಿ ಬರಿಗೆಯ್ದಡೆ
ನಡೆಯೊಂದೆ ಸಸಿನ ಕಂಡಾ.
ಒಂದ ಮೂರು ಮಾಡಿದಡೆಯೂ ಒಂದೆ ಕಂಡಾ.
ಮೂರಾರಾದಡೆಯೂ ಒಂದೆ ಕಂಡಾ.
ಆರು ಮುವತ್ತಾರಾದಡೆಯೂ ಒಂದೆ ಕಂಡಾ.
ನಿನ್ನ ಅವಯವಂಗಳೆಲ್ಲ ಒಂದೆ ಕಂಡಾ.
ನಿನ್ನ ಅರಿವು ಹಲವಾದಡೆ ಅರಿವು ನಿನಗೊಂದೆ ಕಂಡಾ.
ಕತ್ತಲೆಯ ಮನೆ, ಮಾಯೆಯ ಕಾಡುವ ನಿದ್ರೆ,
ಜಾಗರವಾಗಿ ಕಂಗೆಡಿಸಲು, ಕಂಗಳ ಹರವರಿಯಲು,
ಮನವ ಮಣ್ಣಿಸು ಕಂಡಾ.
ಗುಹೇಶ್ವರ ತಾನಾದ ಮುಗ್ಧತನಕ್ಕೆ ಕಡೆಮೊದಲುಂಟೆ ? ॥೭೮೮॥

೧೪೮೩

ಯೋಗ ವಿಯೋಗವೆಂಬ ಹೊಲಬ ಬಲ್ಲವರನಾರನೂ ಕಾಣೆನು.
ನವನಾಳದ ಸುಳುಹ ತಿಳಿದಹೆನೆಂಬುದು ಯೋಗವಲ್ಲ.
ಐವತ್ತೆರಡಕ್ಷರದ ಶಾಸನವ ತಿಳಿದು ನೋಡಿ,
ಹೃದಯಕಮಲಕರ್ಣಿಕೆಯಲ್ಲಿ ಸಿಲುಕಿದೆನೆಂಬುದು ಯೋಗವಲ್ಲ.
ಬಹಿರಂಗವೆಂಬಡೆ ಕ್ರಿಯಾರಹಿತ (ಬದ್ಧ?) ಅಂತರಂಗವೆಂಬಡೆ ವಾಙ್ಮನೋತೀತ
ಗುಹೇಶ್ವರನೆಂಬ ಲಿಂಗವು ಷಡುಚಕ್ರದ ಮೇಲಿಲ್ಲ ಕಾಣಾ
ಸಿದ್ಧರಾಮಯ್ಯಾ. ॥೭೮೯॥

೧೪೮೪

ಯೋಗ ಶಿವಯೋಗಗಳ ಹೊಲಬನರಿಯದೆ
ಯೋಗಿಗಳು ಶಿವಯೋಗಿಗಳು ಎಂದರೆ,
ಶೀಳ್ನಾಯಿ ಸಿಂಹನಾಗಬಲ್ಲುದೆ ?
ಯೋಗದ ಅಷ್ಟಾಂಗವನು, ಶಿವಯೋಗದ ಷಟ್‌ಸ್ಥಲವನು
ಶಿವಲಿಂಗದಲ್ಲಿ ಹುರಿಗೊಳಿಸಿದಲ್ಲದೆ
ಯೋಗ ಶಿವಯೋಗಗಳ ಹೊಲಬಿನ ನಿಲುಕಡೆಯು ನಿಲುಕದು
ಅದೆಂತೆಂದೊಡೆ:—
ಯಮ ನಿಯಮಗಳ ಗುಣಧರ್ಮಗಳನರಿತಾಚರಿಪನೆ ಭಕ್ತ
ಆಸನಗಳ ಭೇದವನರಿತಾಚರಿಪನೆ ಮಹೇಶ್ವರ
ಚರಾಚರಾತ್ಮಕವೆನಿಪ್ಪ ಪ್ರಾಣಿಗಳಿಗೆ ಲಯಸ್ಥಾನವಾದ
ಪ್ರಾಣಾಯಾಮದ ಭೇದವನರಿತಾಚರಿಪನೆ ಪ್ರಾಣಲಿಂಗಿ
ಪಂಚೇಂದ್ರಿಯ ವಿಷಯಂಗಳಲ್ಲಿ ಸಂಚರಿಪ
ಮನ—ಮಾರುತಂಗಳ ಸಂಯಮದ ನಿಗ್ರಹದ
ಪ್ರತ್ಯಾಹಾರವನರಿತಾಚರಿಪನೆ ಪ್ರಸಾದಿ
ಇಷ್ಟಲಿಂಗಧ್ಯಾನದ ಮೂಲವನರಿತು
ಭಾವದ ಹಸ್ತದಲ್ಲಿ ಧರಿಸುವ ಮಹಾಲಿಂಗದ
ಧ್ಯಾನ—ಧಾರಣಗಳನರಿತಾಚರಿಪನೆ ಶರಣ
ಅಂತಪ್ಪ ಭಾವದ ಹಸ್ತದಲ್ಲಿ ಧ್ಯಾನಧಾರಣಗಳಿಂದತಂದ
ಮಹಾಲಿಂಗದಲ್ಲಿ ಕೂಡಿ ಸಮರಸವಾಗುವ
ಸಮಾಧಿಯನರಿತಾಚರಿಪನೆ ಐಕ್ಯ
ಅದೆಂತೆಂದೊಡೆ:
ಯೋಗಜಾಗಮೇ

"ಯಮೇನ ನಿಯಮೇನೈವಮನ್ಯೇಭಕ್ತ ಇತಿ ಸ್ವಯಂ
ಸ್ಥಿರಾಸನಸಮಾಯುಕ್ತೋ ಮಾಹೇಶ್ವರ ಪದಾನ್ವಿತಃ
ಚರಾಚರಲಯಸ್ಥಾನಂ ಲಿಂಗಮಾಕಾಶಸಂಜ್ಞಕಂ
ಪ್ರಾಣೇತದ್ವ್ಯೋಮ್ನಿ ತಲ್ಲೀನೇ ಪ್ರಾಣಲಿಂಗಿಭವೇತ್ಸಮಾನೆ
ಪ್ರತ್ಯಾಹಾರೇಣ ಸಂಯುಕ್ತಃ ಪ್ರಸಾದೀತಿ ನ ಸಂಶಯಃ
ಧ್ಯಾನಧಾರಣ ಸಂಪನ್ನಃ ಶರಣಸ್ಥಲವಾನೆಸುಧಿಃ
ಲಿಂಗೈಕ್ಯೋದ್ವೈತಭಾವತ್ಮಾ ನಿಶ್ಚಲೈಕಸಮಾಧಿನಾ
ಏವಮಷ್ಟಾಂಗಯೋಗೇನ ವೀರಶೈವೋಭವೇನ್ನರಃ
ತಸ್ಮಾತ್ ಸರ್ವಪ್ರಯತ್ನೇನ ಕರ್ಮಣಾಜ್ಞಾನತೋಪಿವಾ
ತ್ವಮಪ್ಯಷ್ಟಾಂಗ ಮಾರ್ಗೇಣ ಶಿವಯೋಗೀಭವೇತ್
ಎಂಬುದಾಗಿ.
ಇಂತಪ್ಪ ಅಷ್ಟಾಂಗಯೋಗದ ಕೀಲವನು
ಷಟ್‌ಸ್ಥಲ, ಶಿವಯೋಗದಲ್ಲಿ, ನಿಜವೀರಶೈವನಾಗುವ
ನಿಲುವಳಿಯನರಿದು, ನಮ್ಮ ಗುಹೇಶ್ವರಲಿಂಗದಲ್ಲಿ
ನಿಬ್ಬೆರಗುಗೊಂಡವರಿಬ್ಬರು
ಶಿವಸಿದ್ಧರಾಮ, ನಿಜಗುಣಶಿವಯೋಗಿಗಳು ಕೇಳಾ ಗೋರಕ್ಷಯ್ಯ. ॥೯೦॥

೧೪೮೫

ಯೋಗ ಶಿವಯೋಗವೆಂಬರು.
ಯೋಗದ ಹೊಲಬನಾರು ಬಲ್ಲರಯ್ಯಾ ?
ಹೃದಯಕಮಲ ಮಧ್ಯದಲ್ಲಿ ಭ್ರಮಿಸುವನ ಕಳೆದಲ್ಲದೆ
ಯೋಗವೆಂತಪ್ಪುದೊ ?
ಐವತ್ತೆರಡಕ್ಷರದ ಲಿಪಿಯ ಓದಿ ನೋಡಿ ತಿಳಿದಲ್ಲದೆ
ಯೋಗವೆಂತಪ್ಪುದೊ ?
ಆರುನೆಲೆಯ ಮೇಲಿಪ್ಪ ಮಣಿಮಾಡದೊಳಗೆ ಇರಬಲ್ಲಡೆ
ಅದು ಯೋಗ !
'ಸೋಽಹಂ' ಎಂಬಲ್ಲಿ ಸುಳುಹಡಗಿ ಮನ ನಷ್ಟವಾಗಿರಬಲ್ಲ ಕಾರಣ,
ಗುಹೇಶ್ವರಲಿಂಗದಲ್ಲಿ ನೀನು ಸ್ವತಂತ್ರಧೀರನೆಂಬುದು
ಕಾಣಬಂದಿತ್ತು ನೋಡಾ ಸಿದ್ಧರಾಮಯ್ಯಾ. ॥೯೧॥

೧೪೮೬

ಯೋನಿಗ್ರಾಮದಲ್ಲಿ ಹುಟ್ಟಿ ದೇಹಪ್ರಪಂಚವನರಿಯದೆ
ಭಕ್ತರೆಂತಾದಿರಿ ಭೋ !

ಭಕ್ತಿ ಷಟ್ಸ್ಥಲದ ಭೇದವ ನಿಶ್ಚೈಸಲರಿಯದೆ
ಜಂಗಮವೆಂತಾದಿರಯ್ಯಾ ?
ನಿಃ ಕಾಮಿಯಾಗಿ ನಿಃ ಪ್ರಿಯನಾಗಿ ನಿರ್ಮೋಹಿಯಾಗಿ,
ನಿರಾಶ್ರಿತನಾಗಿ ನಿರ್ಲೇಪನಾಗಿ,
ಉಭಯಗುಣ ರಹಿತನಾಗಿ,
ಸರ್ವಾಂಗದಲ್ಲಿ ನಿರ್ಮೋಹಿಯಾಗಿ,
ತನು ಮನ ಧನ ಸುಖಾದಿಗಳ ನಿರ್ವಹಿಸಿ,
ಬಂದುದನೆ ಪರಿಣಾಮಿಸಿ ಇರಬಲ್ಲಡೆ ಜಂಗಮಸ್ಥಲವಹುದು.
ಆತನೆ ಜಂಗಮವೆಂಬುದಾಗಿತ್ತಾಗಿ
ಗುಹೇಶ್ವರ ಲಿಂಗ ತಾನೆಂಬೆ. ||೮೯೨||

೧೪೪೭

ರಂಜಕರೆಲ್ಲರು ರತ್ನವ ಕೆಡಿಸಿ ಅಂಧಕಾರದಲ್ಲಿ ಬಂದರಸುವರು.
ಅದರಂದ ತಿಳಿಯದು ಛಂದ ತಿಳಿಯದು.
ಬಂದ ಬಟ್ಟೆಯಲಿ ತೊಳಲುವರು.
ಸಂದೇಗವಿಡಿದು ಸಂದವರೆಲ್ಲ ಅಂದಂದಿಗೆ ದೂರ ಗುಹೇಶ್ವರಾ. ||೮೯೩||

೧೪೪೮

ರತ್ನದೀಪ್ತಿಯಾದಡೇನು ? ಬಂಧಿಸಿದ ಕುಂದಣದಲ್ಲಿಯೆ ಸಂದಿರಬೇಕು.
ಸ್ವಾದುರಸದ ರುಚಿಯನೀವ ಫಲವೆಂದಡೇನು ವೃಕ್ಷವಿಲ್ಲದನ್ನಕ್ಕರ ?
ಚಿತ್ರಸೌಂದರ್ಯ ನೋಟಕೆ ಸುಖವೆಂದಡೇನು
ಭಿತ್ತಿಯ ಪಟ ಮುಖ್ಯಸ್ಥಾನದಲ್ಲಿಲ್ಲದನ್ನಕ್ಕರ ?
ಅಂಜನ ಸಿದ್ಧಿಯಿಂ ನಿಧಾನವ ಕಂಡಡೇನು
ಸಾಧನ ಕ್ರೀಯಿಂದ ಸಾಧ್ಯವ ಮಾಡಿಕೊಳ್ಳದನ್ನಕ್ಕರ ?
ಇದು ಕಾರಣ–
ಕಾಯದ ಕರಸ್ಥಲಕ್ಕೆ ಇಷ್ಟಲಿಂಗಸಾಹಿತ್ಯವಿಲ್ಲದಿದ್ದಡೆ,
ನಿರವಯವಾದ ಜ್ಞಾನಯೋಗ ಕೂಟ ಸಾಧ್ಯವಾಗದು.
ಇದು ಕಾರಣ–
ಕ್ರಿಯಾಲಿಂಗಸಂಬಂಧವೆ ಭಕ್ತಂಗೆ ಮತವು. ಇದೇ ಕಾರಣ ದೇಹಶೌಚವು !
ನಮ್ಮ ಗುಹೇಶ್ವರನ ಶರಣರ ಮನ ಒಪ್ಪುವಂತೆ
ಸಿದ್ಧರಾಮಯ್ಯಂಗೆ ಲಿಂಗಸಾಹಿತ್ಯವ ಮಾಡಾ ಚೆನ್ನಬಸವಣ್ಣಾ. ||೮೯೪||

೧೪೯೯

ರವಿಕಾಂತಿಯ ಪ್ರಭೆ ಪಾಷಾಣವ ಕೂಡಿ ರತ್ನವೆನಿಸಿಕೊಂಬಂತೆ
ಅರಿವ ಜ್ಞಾನ ಮಾಡುವ ಸತ್ಕ್ರೀಯಿಂದಲ್ಲದೆ
ಆ ಸಾಕಾರದ ಪಟಲವು ಹರಿಯದು.
ಈ ರವಿಕಾಂತಿಯ ಪ್ರಭೆಯಿಲ್ಲದಿದ್ದಡೆ
ಆ ಪಾಷಾಣಕ್ಕೆ ರತ್ನವೆಂಬ ಕುಲ ಮುನ್ನವೇ ಇಲ್ಲ.
ರವಿಕಾಂತಿಯ ಪ್ರಭೆಯಡಗೂದಕ್ಕೆ ಪಾಷಾಣ ಹೇಂಗೆ
ಅರಿವಡಗೂದಕ್ಕೆ ಕುರುಹೆಂಬ ನಾಮ ಹಾಂಗೆ.
ಆ ಉಭಯವಡಗಿ ಕುರುಹಿಲ್ಲದಿದ್ದಡೆ ಮತ್ತೆ
ನಮ್ಮ ಗುಹೇಶ್ವರನೆಂಬ ಮಾತಿನ ಕುರುಹಿಲ್ಲದಿರಬೇಕು.
ಕಾಣಾ ಎಲೆ ಅಂಬಿಗರ ಚೌಡಯ್ಯ. ॥೭೯೫॥

೧೫೦೦

ರಾಗವಡಗಿ ತಾಮಸ ನಿಂದು, ಅಹಂಕಾರದ ಗಿರಿ ಉಡುಗಿ,
ಮಾತಿನ ಬಣವೆಯ ಮೆದೆಯ ಸುಟ್ಟುರುಹದೆ,
ಕಾಯ ಕರ್ಮದಲ್ಲಿ ಸವೆಯುತ್ತ, ಜೀವ ಸಕಲ ಸಂಸಾರದಲ್ಲಿ ನೋಯುತ್ತ [ಇದ್ದಡೆ]
ಮತ್ತೆ ಭಾವಶುದ್ಧವುಂಟೆ ಗುಹೇಶ್ವರಲಿಂಗಕ್ಕೆ ? ॥೭೯೬॥

೧೫೦೧

ರಾತ್ರಿಯೆಂಬ ಹುತ್ತಿನೊಳಗೆ ನಿದ್ರೆಯೆಂಬ ಕಾಳೋರಗ,
ಹೆಡೆಯನೆತ್ತಿ ಆಡಿ ಕಚ್ಚಲೊಡನೆ
ಅಂಜನಸಿದ್ಧರ ಅಂಜನ ಕರಗಿತ್ತು, ಘುಟಿಕಾಸಿದ್ಧರ ಘುಟಿಕೆ ಉರುಳಿತ್ತು
ಯಂತ್ರಿಗಳ ಯಂತ್ರ ಅದ್ದಿ ಹೋಯಿತ್ತು,
ಮಂತ್ರಿಗಳ ಮಂತ್ರ ಮರೆತು ಹೋಯಿತ್ತು
ಔಷಧಿಕರ ಔಷಧವನು ಅಳಿಗೊಂಡಿತ್ತು,
ಸರ್ವ ವಿದ್ಯಾಮುಖದ ಜ್ಯೋತಿ ನಂದಿತ್ತು,
ಇದರ ವಿಷವ ಪರಿಹರಿಸುವರನಾರನೂ ಕಾಣೆ.
ಈ ರಾಹುವಿನ ವಿಷಯದಲ್ಲಿ ತ್ರಿಭುವನವೆಲ್ಲ
ಮೂರ್ಛಿತವಾಗುತ್ತಿಹುದು ಗುಹೇಶ್ವರಾ. ॥೭೯೭॥

೧೫೦೨

"......................ರು, ನೀವು ಕೇಳಿ,
ನಿಚ್ಚಕ್ಕೆ ನಿಜಹುಸಿಯ ಕಂಡೆವಲ್ಲಾ !

ವಾಯು ಬೀಸುವಲ್ಲಿ ಆಕಾಶ ಬಲಿದಲ್ಲಿ
ಲಿಂಗಾರ್ಪಿತ ಮುಖವನರಿಯರಲ್ಲ.
ಭೋಜನವನುಂಡು ಭಾಜನವನಲ್ಲಿಟ್ಟು ಹೋಹ
ಹಿರಿಯರ ವ್ರತಕ್ಕೆ ಅದೇ ಭಂಗ ಕಾಣಾ ಗುಹೇಶ್ವರಾ. ॥೭೯೮॥

೧೪೯೩

ರೂಪಿಂಗೆ ಕೇಡುಂಟು ನಿರೂಪಿಂಗೆ ಕೇಡಿಲ್ಲ.
ರೂಪು ನಿರೂಪನೊಡಗೂಡುವ ಪರಿ ಎಂತು ಹೇಳಾ ?
ಅಸಂಬಂಧ ಸಂಬಂಧವಾಗಿ ಇದೆ.
ದೇಹ ಇಂದ್ರಿಯವೆಂಬ ಜಾತಿಸೂತಕವಿರಲು
ಗುಹೇಶ್ವರಲಿಂಗವ ಮುಟ್ಟಬಾರದು ಕೇಳವ್ವಾ. ॥೭೯೯॥

೧೪೯೪

ರೂಪಿಂಗೆ ಬಂದು ನಿಂದುದು ಮಾತಿಂಗೆ ಒಡಲಾಯಿತ್ತು.
ಮಾತಿಂಗೆ ವೇಧಿಸಿದ ಮನ ರಾಟಾಳದ ಕುಂಭದಂತೆ.
ಆದ ನೇತಿಗಳೆದು ನಿಂದಲ್ಲಿ
ಗುಹೇಶ್ವರಲಿಂಗ ತಾನೆ ಸಂಗನಬಸವಣ್ಣಾ. ॥೮೦೦॥

೧೪೯೫

ರೂಪೆಂದಡೆ ನಷ್ಟ, ನಿರೂಪೆಂದಡೆ ಶೂನ್ಯ.
ರೂಪು ನಿರೂಪನತಿಗಳೆದ ರೂಪ ಕಾಬಡೆ
ಗುಹೇಶ್ವರಲಿಂಗದಲ್ಲಿ ತನ್ನ ರೂಪನತಿಗಳದು ಕಾಣಬೇಕು ಕಾಣಾ
ಸಿದ್ಧರಾಮಯ್ಯಾ. ॥೮೦೧॥

೧೪೯೬

ಲಿಂಗಗಂಭೀರ ಸುನಾದವೆ ತನುಗುಣ ಚರಿತ್ರ
ಜಂಗಮಗಂಭೀರ ಅನಾಹತವೆ ಮನಗುಣ ಸ್ವಭಾವ.
ಈ ಎರಡರ ಸಂಬಂಧವೆ ಒಡಲು.
ಪರಮಾನಂದ ಜಲದಲ್ಲಿ ಅಲುಬಿ, ಮಹಾಪ್ರಕಾಶದಲ್ಲಿ ಆರಿಸಿ
ಅನಾಹತ ಮಥನದಲ್ಲಿ ಘಟ್ಟಿಸಿ ಆ ವಸ್ತ್ರವ ಎನಗೆ ಕೊಟ್ಟಡೆ
ಉಡದ ಮುನ್ನವೆ ಉರಿ ಹತ್ತಿತ್ತು ನೋಡಾ !
ಆ ಉರಿಯು ಕಣ್ಣಿಗೆ ಕಾಣಬಾರದು ಮನಕ್ಕೆ ನೆನೆಯಬಾರದು.

ಉರಿ ಉಂಟು ಉಷ್ಣವಿಲ್ಲದ ಆ ಸ್ವಯಂಜ್ಯೋತಿಯ
ನಿಜನಿವಾಸದಲ್ಲಿ ನಿಶ್ಚಿಂತನಾಗಿದ್ದು. ಮಡಿವಾಳನ ಕೃಪೆಯಿಂದ
ನಾನು ಬದುಕಿದೆನು ಕಾಣಾ ಗುಹೇಶ್ವರಾ. ॥೮೦೨॥

೧೪೯೭

ಲಿಂಗ ಜಂಗಮುವ ಪೂಜಿಸಿ ಭಕ್ತನಾದೆನೆಂದಡೆ
ಸದಾಚಾರವಿರಬೇಕು ನೋಡಾ.
ಆ ಸದಾಚಾರಕ್ಕೆ ಭೃತ್ಯಾಚಾರವೆ ಮೊದಲು ನೋಡಾ.
ವಿಶ್ವಾಸವುಳ್ಳ ಭಕ್ತಿಗೆ ಹೊರೆಯಿಲ್ಲ !
ಅಲಂಕಾರವೆಂಬ ಅಲಗ ಹಿಡಿದು ಮಾಡುವ ಭಕ್ತಿ ತನ್ನನೆ ಇರಿವುದು
ಗುಹೇಶ್ವರನೆಂಬ ಹಗೆಯ ಗೆಲುವಡೆ
ಅರಿವೆಂಬ ಅಲಗ ಅವಧಾನ ತಪ್ಪದೆ ಹಿಡಿಯಬೇಕು ನೋಡಾ
ಸಂಗನಬಸವಣ್ಣಾ. ॥೮೦೩॥

೧೪೯೮

ಲಿಂಗ ಜಂಗಮುವೆಂಬ ಸಕೀಲವ ಅರಿದು
ಲಿಂಗಾರ್ಚನೆ ಜಂಗಮಾರ್ಚನೆಯ ಮಾಡಲು
ಆ ಲಿಂಗ ಜಂಗಮುದೊಳಡಗಿ,
ಆ ಜಂಗಮು ಪರಾಪರವೆಂದರಿದು ತೋರಿತ್ತು –
ಆ ಜಂಗಮುವೆಂಬ ಘನವು ನಿಮ್ಮೊಳಡಗಿದ ಕಾರಣ,
ಗುಹೇಶ್ವರಾ. ನಿಮ್ಮ ಅನುವನರಿದು
ಸಂಗನಬಸವಣ್ಣನು ತನ್ನ ಪ್ರಸಾದವನಿಕ್ಕಿದಡೆ
ನಿಮ್ಮ ಪ್ರಮಥರೆಲ್ಲರು ಜಯ ಜಯ ಎನುತಿರ್ದರಾಗಿ
ನಾನು ಬಸವಣ್ಣಂಗೆ ನಮೋ ನಮೋ ಎನುತಿರ್ದೆನು. ॥೮೦೪॥

೧೪೯೯

ಲಿಂಗದಲ್ಲಿ ಆಗಾಗಿ ಅಂಗವಿರಹಿತನಾಗಿ ಫಲವೇನಯ್ಯಾ ?
ಜಂಗಮುದಲ್ಲಿ ಸನ್ನಹಿತನಾಗಿ ದಾಸೋಹವ ಮಾಡಿ ಫಲವೇನಯ್ಯಾ ?
'ನೀ' 'ನಾ' ಎಂಬ ಭಾವ ಉಳ್ಳನ್ನಕ್ಕರ
ಜಂಗಮುದಲ್ಲಿ ಸಮುಯಾಚಾರಿಯಾಗಿಪ್ಪನ್ನಕ್ಕರ
ಮಾಡುವ ಭಕ್ತಿಗೆ ಭಿನ್ನವದೆ.
ಗುಹೇಶ್ವರಲಿಂಗದಲ್ಲಿ ಸಂಗನಬಸವಣ್ಣಂಗೆ
ಆಚರಣೆ ತಿಳಿಯದು ನೋಡಾ ಚೆನ್ನಬಸವಣ್ಣಾ. ॥೮೦೫॥

೧೫೦೦

ಲಿಂಗದೊಳಗೆ ಜಂಗಮ, ಜಂಗಮದೊಳಗೆ ಲಿಂಗ ಎಂದು ಅರಿದು ಮರೆದು
ಬರುದೊರೆವೋದವರು, ಜಂಗಮವನಿನ್ನು ಬೇರೆ ಅರಸಲೇಕಯ್ಯಾ ?
ಆ ಲಿಂಗದೊಳಗೆ ಜಂಗಮವ ಅರಸಿಕೊಂಬುದು.
ಲಿಂಗಾರ್ಚನೆಯ ಅವಸರಕ್ಕೆ ಜಂಗಮ ಮನೆಗೆ ಬಂದಡೆ
ಲಿಂಗಾರ್ಚನೆಯ ಮಾದು, ಜಂಗಮಕ್ಕೆ ಇದಿರೆದ್ದು ವಂದಿಸಿ
ಭಕ್ತಿಯ ಮಾಡಬಲ್ಲಾತನೆ ಭಕ್ತ.– ಆ ಜಂಗಮ ಹೊರಗಿರಲು
ಲಿಂಗಾರ್ಚನೆಯ ಮಾಡುತ್ತಿಪ್ಪಾತನೇತರ ಭಕ್ತ ?
ಜಂಗಮದ ಮುಂದೆ ಲಿಂಗವ ಕೈಯಲ್ಲಿ ಹಿಡಿದುಕೊಂಡು
ಸಹಪಂಕ್ತಿಯಲ್ಲಿ ಕುಳ್ಳಿರ್ದು ಪೂಜಿಸುವಾತ ಭೃತ್ಯಾಚಾರದ್ರೋಹನು.
ಆ ಭಕ್ತನ ಮನೆಯ ಹೋಗುವ ಜಂಗಮ ಅಜ್ಞಾನಿ.
ನಮ್ಮ ಗುಹೇಶ್ವರನ ಶರಣರ ಕೂಡ
ಅಹಂಕಾರವ ಹೊತ್ತಿಪ್ಪವರ ಕಂಡಡೆ
ನಾನೊಲ್ಲೆ ಕಾಣಾ ಸಂಗನಬಸವಣ್ಣಾ. ॥೮೦೬॥

೧೫೦೧

ಲಿಂಗ ನಿಮ್ಮದಾದಡೆ ನಿಮ್ಮ ಅಂಗೈಯೊಳಗೇಕೆ ಅಡಗದು ?
ನಿಮ್ಮ ಅಂಗಮಯ ಲಿಂಗವಾದಡೆ
ಸಂಸಾರದ ಅಂಗವ ಉಲುಹೇತಕ್ಕೆ ?
ಅದು ನಮ್ಮ ಗುಹೇಶ್ವರಲಿಂಗದಲ್ಲಿ
ಲಿಂಗದ ಮೆಚ್ಚಿಲ್ಲವೆಲೆ ಭ್ರಾಂತು ಯೋಗಿ. ಘಟ್ಟಿವಾಳಯ್ಯ. ॥೮೦೭॥

೧೫೦೨

ಲಿಂಗ ನೋಡಿದರೆ ನೋಡುವ, ಲಿಂಗ ಕೇಳಿದರೆ ಕೇಳುವ.
ಲಿಂಗ ಮುಟ್ಟಿದರೆ ಮುಟ್ಟುವ, ಲಿಂಗ ರುಚಿಸಿದರೆ ರುಚಿಸುವ.
ಲಿಂಗ ವಾಸಿಸಿದರೆ ವಾಸಿಸುವ ಲಿಂಗ ಕ್ರೀಡಿಸಿದರೆ ಕ್ರೀಡಿಸುವ.
ಇಂತಪ್ಪ ಲಿಂಗ ಪ್ರಸಾದಭೋಗದಲ್ಲಿ ಪರಿಣಾಮಿ
ಗುಹೇಶ್ವರಾ ನಿಮ್ಮ ಶರಣ. ॥೮೦೮॥

೧೫೦೩

ಲಿಂಗವಂತಂಗೆ ಲಿಂಗದ ವಾರ್ತೆಯ ನುಡಿವುದೆ ಭಂಗ.
ಹಂಗು ನೋಡಾ ಹಂಗಿನ ಶಬ್ದ ನೋಡಾ !

ಕೊಡನ ತುಂಬಿದ ಹಾಲನೊಡೆಯ ಹಾಯ್ಕಿ
ಇನ್ನು ಉಡಿಗಿಹೆನೆಂದಡೆ ಉಂಟೆ ? ಗುಹೇಶ್ವರಾ ? ॥೮೯॥

೧೫೦೪

ಲಿಂಗವಂತನ ನಡೆ ನುಡಿ ಚಾರಿತ್ರ ನಿಂದಕವನಾಡಿದಡೆ
ಆ ಲಿಂಗ ನಿಮ್ಮ ಹಲ್ಲ ಕಳೆವ; ಆ ಲಿಂಗ ನಿಮ್ಮ ನರಕಕ್ಕಿಕ್ಕುವ.
ಆ ಲಿಂಗವಂತ ಲಿಂಗ ಪ್ರಾಣಿಯಾಗಿಪ್ಪ.
ಇದು ಸತ್ಯ ವಚನ.
ಇದ ಕೇಳಿ ಲಿಂಗವಂತನ ನಾಸ್ತಿಕವನಾಡಿದಡೆ
ರೌರವನರಕದಲ್ಲಿಕ್ಕುವ ಕಾಣಾ
ಗುಹೇಶ್ವರಾ. ॥೮೧೦॥

೧೫೦೫

ಲಿಂಗವನರಿಯದೆ ಏನನರಿದಡೆಯೂ ಫಲವಿಲ್ಲ,
ಲಿಂಗವನರಿದ ಬಳಿಕ ಮತ್ತೇನನರಿದಡೆಯೂ ಫಲವಿಲ್ಲ.
ಸರ್ವಕಾರಣ ಲಿಂಗವಾಗಿ,
ಲಿಂಗವನೆ ಅರಿದರಿದು ಲಿಂಗಸಂಗವನೆ ಮಾಡುವೆ.
ಸಂಗಸುಖದೊಳು ಓಲಾಡುವೆ ಗುಹೇಶ್ವರಾ. ॥೮೧೧॥

೧೫೦೬

ಲಿಂಗವಿಚಾರ ಆಚಾರದೊಳಡಗಿ,
ಆಚಾರಕ್ರಿಯೆಗಳು ಗುರುವಿನೊಳಡಗಿ
ಗುರುವೆನ್ನಂಗದೊಳಡಗಿ,
ಅಂಗ ಲಿಂಗ ನೈಷ್ಠೆಯೊಳಡಗಿ,
ಲಿಂಗನೈಷ್ಠೆಯ ಆಚರಣೆಯಾಚಾರವಾವರಿಸಿ,
ಆಚಾರದ ನಿಲವ ಗುರುಮೂರ್ತಿಯಾವರಿಸಿ,
ಗುರುಮೂರ್ತಿ ಸರ್ವಾಂಗವನಾವರಿಸಿ,
ಸರ್ವಾಂಗವ ಲಿಂಗನೈಷ್ಠೆಯಾವರಿಸಿ,
ಲಿಂಗನೈಷ್ಠೆಯ ಸಾವಧಾನವಾವರಿಸಿ,
ಸಾವಧಾನ ಸುವಿಚಾರವ ಮಹಾಜ್ಞಾನವಾವರಿಸಿ,
ಮಹಾಜ್ಞಾನದೊಳಗೆ ಪರಮಾನಂದ ನಿಜನಿಂದು,
ನಿಜದೊಳಗೆ ಪರಮಾಮೃತ ತುಂಬಿ,

ಮೊದಲ ಕಟ್ಟೆ ಒಡೆದು.
ನಡುವಣ ಕಟ್ಟೆಯನಾಂತು ನಿಂದು,
ನಡುವಣ ಕಟ್ಟೆಯು ಎರಡು ಕಟ್ಟೆಯು ಕೂಡಿ ಬಂದು ಕಟ್ಟೆಯನಾಂತುದು.
ಈ ಮೂರು ಕಟ್ಟೆಯನೊಡೆದ ಮಹಾಜಲವೆ ಪರಮಪದವಾದುದು.
ಆ ಪದದಲ್ಲಾನೆರಗಿ ಪಾದೋದಕ ಕೊಂಡೆನ್ನ ನಾನರಿಯದೆ ಹೋದೆ
ಕಾಣಾ ಗುಹೇಶ್ವರಾ. ॥೮೧೨॥

೧೫೦೭

ಲಿಂಗವಿಡಿದು ಅರಿವ ಅರಿವು ಅವಲ್ಲದೆ
ಗುರುವಿಡಿದು ಅರಿವ ಅರಿವು ಅರಿವಲ್ಲ.
ಗುರುವಿಡಿದು ಲಿಂಗವುಂಟೆಂಬುದು ಕಲ್ಪಿತ,
ತನ್ನಿಂದ ತಾನಹುದಲ್ಲದೆ.
ಗುಹೇಶ್ವರಲಿಂಗದಲ್ಲಿ ಹಂಗು ಹರಿಯದನ್ನಕ್ಕರ
ತಾನಾಗಬಾರದು ಕಾಣು ಚೆನ್ನಬಸವಣ್ಣಾ. ॥೮೧೩॥

೧೫೦೮

ಲಿಂಗವೆ ಕರಲಿಂಗವೆ ನುತಿವೆತ್ತ ಗುರುವಿತ್ತ–
ಅಂಗವೆ ತನುಕರಣ ಕಣು ಮನವು ಕರವೆನಿಸೆ
ಮಂಗಳವು ಯೋಗದೊಳು ಸಮರಸದಿ ಷಟ್‌ಚಕ್ರ
ಲಿಂಗೈಕ್ಯವಿರ್ಪಗೆಯ ಕುಂಭಕ ಸಮಾಧಿಯೊಳು ಕುಂಡಲಿಯ ಕುಣಿಕೆ ಗುಹ್ಯ.
ಲಿಂಗ ಬಿಂದುವೆ ನಾದ ಲಿಂಗವೆ ಸುಷುಮ್ನಾಗ್ರ–
ಲಿಂಗತನುವೀಡಾಡಿ ಸಂಗದೇರಕದೊಳಾಳೆ ಗುಹ್ಯತಮ ಗುಹೇಶ್ವರ. ॥೮೧೪॥

೧೫೦೯

ಲಿಂಗವೆ ಪ್ರಾಣ. ಪ್ರಾಣವೆ ಲಿಂಗವಾಯಿತ್ತು.
ಆ ಲಿಂಗವೆ ಲಿಂಗಾಂಗವಾಯಿತ್ತು.
ಗುಹೇಶ್ವರಲಿಂಗದಲ್ಲಿ
ಸರ್ವಾಂಗ ಪ್ರಾಣಲಿಂಗ ಸ್ವಾಯತವಾಯಿತ್ತು ಕಾಣಾ
ಚೆನ್ನಬಸವಣ್ಣಾ. ॥೩೧೫॥

೧೫೧೦

"ಲಿಂಗ ಸೂತ್ರಾತ್ಮನೋಽಪಿ, ವಿಶ್ವತಶ್ಚಕ್ಷುಂ, ಊರ್ಧ್ವರೇತಂ ವಿರೂಪಾಕ್ಷಃ, ಪುರುಷಂ ಕೃಷ್ಣಪಿಂಗಳಂ
ಋತಗ್‌ಂ ಸತ್ಯಂ ಪರಬ್ರಹ್ಮಂ, ಲಿಂಗಂ ಮನಂ
ತಮವ್ಯಕ್ತಮಚಿಂತ್ಯಂ, ಲಿಂಗಂ ಶಿವ ಪರಾತ್ಪರಮಧಿಷ್ಠಾನಾಂ ಸಮಸ್ತಸ್ಯಂ"
ಎಂಬ ಶ್ರುತಿಯುಂಟಾಗಿ;
ಜಗವೆಲ್ಲಾ ನೇತ್ರಂಗಳಾಗಿರ್ಪಾತನು ಶಿವನೆನಲಾ ಶ್ರುತಿ
ಜಗವೆಲ್ಲಾ ನೇತ್ರಂಗಳಾಗಿದ್ದರೆ,
ನೇತ್ರಂಗಳೊಳಗೆ ಉತ್ತಮ ಮಧ್ಯಮ ಕನಿಷ್ಠಂಗಳೇಕಾದವೆಂದಡೆ,
ನೇತ್ರಕ್ಕೆ ನೇತ್ರವಾದ ಜಗನೇತ್ರಕ್ಕೆ ಪ್ರಕಾಶವಾಗಿ
ತನ್ನ ತಾ ತೋರದಿದ್ದಂತೆ,
ಜ್ಯೋತಿರ್ಲಿಂಗವನೆ ನೋಡಿದ ನೇತ್ರವು ಲಿಂಗನೇತ್ರವು.
ಅದೀಗ ಉತ್ತಮವು.
ಖಗಮೃಗ ಕ್ರಿಮಿಕೀಟ ಪತಂಗ ನೇತ್ರಂಗಳು
ಉಭಯ ಕರ್ಮಂಗಳಿಲ್ಲವಾಗಿ ದೃಷ್ಟಿದೋಷವಿಲ್ಲ.
ಅದು ಮಧ್ಯಮವೆನಿಸಿತ್ತು.
ಅಪವಿತ್ರಜೀವಿಗಳಾದ ಭವಿಗಳ ನೇತ್ರವು ಉಭಯ ಕರ್ಮಕ್ಕನುಕೂಲವಾದ ಕಾರಣ,
ಚರ್ಮಚಕ್ಷುವೆಂದು ತನ್ನ ತಾನರಿಯದ ಗಾಢಾಂಧಕಾರವೆಂದು,
ಮೀನನೇತ್ರವೆಂದು ವಿಷನೇತ್ರ ವಿಷಯನೇತ್ರವೆಂದು
ಮನ್ಮಥನ ಕೈಗೆ ಸಿಲ್ಕಿದ ನೀಲೋತ್ಪಲಬಾಣವೆಂದು,
ತಾಮಸಾಗ್ನಿಯೆಂದು, ನೇತ್ರೇಂದ್ರಿಯವೆಂದು,
ಶಿವಲಾಂಛನಧಾರಿಗಳ ಕೆಡಿಸುವ ಮಹಾಪಾತಕದೃಷ್ಟಿಯೆಂದು,
ವಿಷಯ ಗಾಳಿಯೆಂದು ಪೇಳಲ್ಪಟ್ಟಿತ್ತು.
ಅವರಿಗಿಷ್ಟಲಿಂಗಧಾರಣವಿಲ್ಲದ ಕಾರಣ, ಕನಿಷ್ಠವೆಂದು ಪೇಳಲ್ಪಟ್ಟಿತ್ತು.
ಇದು ಕಾರಣ, ಶಿವಭಕ್ತರವರ ನೋಡುವುದಿಲ್ಲ.
ಅವರು ಸುಕರ್ಮ ದುಷ್ಕರ್ಮವೆಂಬ ಮಾಯಾ ರೂಪುಗಳಂ
ಎದುರಿಟ್ಟು ನೋಡುತ್ತಿಹರಾಗಿ,
ಶಿವಾರ್ಚನೆ ಶಿವಾರ್ಪಣವಂ ಮಾಡುವುದಿಲ್ಲ.
ಅವರ ಬಹುಜನ್ಮಾಂತರದ ಮಹಾಪಾತಕಂಗಳು ಶಿವಭಕ್ತರು ತಮ್ಮ ನೋಂಕವೆಂದು.
ಮೇರುಗಿರಿಯಂ ಪಿಡಿದು ಘೋರಾಸ್ತ್ರ ಪ್ರಯೋಗದಿಂ ದಹಿಸಿ
ಗುಹೇಶ್ವರಲಿಂಗವನೊಡಗೂಡುವರು ನೋಡಾ. ॥೮೧೬॥

೧೫೧೧

ಲಿಂಗಾರ್ಪಿತ ಲಿಂಗಾರ್ಪಿತ ಎಂಬರು
ನಾವು ಇದನರಿಯೆವಯ್ಯಾ.
ನಿತ್ಯತೃಪ್ತಲಿಂಗಕ್ಕೆ ಹಸಿವೆಂಬುದುಂಟೆ ?
ಶಿವಾ ಶಿವಾ ತಮ್ಮ ತಮ್ಮ ಹಸಿವ ಲಿಂಗದ ಮೇಲಿಟ್ಟು
ಉಣ್ಣದ ಲಿಂಗಕ್ಕಾಗಿ ಅರ್ಪಿತವ ಮರೆವರು.
ನಮ್ಮ ಗುಹೇಶ್ವರಲಿಂಗಕ್ಕೆ ಒಡಲೆಂಬುದುಳ್ಳಡೆ
ಉದರಾಗ್ನಿಯುಂಟು. ॥೮೧೭॥

೧೫೧೨

ಲೋಕ ಅಳುತ್ತಿದೆ,
ಇದ ಬೇಕು ಬೇಡ ಎಂಬವರ ಒಬ್ಬರನು ಕಾಣೆ.
ದೇಹವೆಂಬುದೊಂದು ವಿಮಾನವ ಮಾಡಿ
ದೇವರೆಂಬುದೊಂದು ಹೆಣನ ಮಾಡಿ ಕುಳ್ಳಿರಿಸಿ,
ದೇವರು ಸತ್ತರೂ ತಮ್ಮಡಿ ಉಳಿದಡೆ
ದೇಗುಲ ಹಾಳಾಯಿತ್ತ ನಾ ಕಂಡೆ.
ಅಂಡಜದವರೆಲ್ಲ (ಪಿಂಡಜದವರೆಲ್ಲ ?) ಮುಂಡೆಯರಾದರು
ನಿಮ್ಮ ಕಂಡವರು ಉ(ಅ?)ಳಿದರೆ ಗುಹೇಶ್ವರಾ ? ॥೮೧೮॥

೧೫೧೩

· ಲೋಭವೆಂಬ ಮಸೆದಡಾಯುಧವನೊರೆಯುಚ್ಚ ಬಾರದು
ಇಂತಪ್ಪ ಕದಳಿಯಂ ಪೊಕ್ಕು ಪೊಡೆಮಾಡಿ ಮುಳ್ಮುಸೆ ಮುಟ್ಟದೆ ಕಳೆದುತ್ತರಿಸಿ
ಗುಹೇಶ್ವರನೆಂಬ ನಿಜಸಮಾಧಿಯಲ್ಲಿ ನಿಂದು ಪರವಶನಾಗಿ
ನಿರಾಳಕ್ಕೆ ನಿರಾಳ ನಿರಾಳ (ಅವಿರಳ) ವಾಗಿರ್ದೆನಯ್ಯಾ. ॥೮೧೯॥

೧೫೧೪

ಲೋಹ ಕರಗಿ ಗುಂಡಾದಲ್ಲಿ ಕಾಯವನಿರಿಯಬಲ್ಲುದೆ ?
ಮಾತಿನ ಅದ್ವೈತದಲ್ಲಿ ನುಡಿವರೆಲ್ಲರೂ
ಗುಹೇಶ್ವರಲಿಂಗವನೆತ್ತಬಲ್ಲರು ಸಂಗನಬಸವಣ್ಣಾ ? ॥೮೨೦॥

೧೫೧೫

ವಚನದ ರಚನೆಯೆಂಬ ಮಾತಿನ ಬಣ್ಣದ ಪರಿಯಲ್ಲ ನೋಡಾ.
ಹೊಗಳಿ ಕಂಡವರೆಲ್ಲರು ಮೂರ್ತಿಗೊಳಗಾದರು.
ವೇದ ಶಾಸ್ತ್ರ ಮಾರ್ಗವೆಲ್ಲವೂ ಹೊಗಳಿ ಕಾಣವೆಂಬುದ,
ಗುಹೇಶ್ವರ ಸಾಕ್ಷಿಯಾಗಿ ಮೂರುಲೋಕ ಬಲ್ಲುದು ಕಾಣಾ
ಸಿದ್ಧರಾಮಯ್ಯಾ. ॥೮೨೧॥

೧೫೧೬

ವರ ವೇಷದ ವಿಭೂತಿ ರುದ್ರಾಕ್ಷಿಯ ಧರಿಸಿಕೊಂಡು
ವೇದ ಶಾಸ್ತ್ರ ಪುರಾಣಾಗಮದ ಬಹುಪಾಠಿಗಳು
ಅನ್ನ ಹೊನ್ನು ವಸ್ತ್ರವ ಕೊಡುವನ ಬಾಗಿಲಕಾಯಿದು
ಮಣ್ಣ ಪುತ್ಥಳಿಯಂತೆ ಅನಿತ್ಯನೇಮದ ಹಿರಿಯರುಗಳು.
ಅದೆಂತೆಂದಡೆ:
ವೇದವೃದ್ಧಾ ವಯೋವೃದ್ಧಾ ಶಾಸ್ತ್ರವೃದ್ಧಾ ಬಹುಶ್ರುತಾಃ ।
ಇತ್ಯೇತೆ ಧನವೃದ್ಧಸ್ಯ ದ್ವಾರೇ ತಿಷ್ಠಂತಿ ಕಿಂಕರಾಃ ॥
ಎಲ್ಲಾ ಹಿರಿಯರುಗಳು ಲಕ್ಷ್ಮಿಯ ದ್ವಾರಪಾಲಕರಾದರಯ್ಯ.
ಅರುಹಿಂಗೀ ವಿಧಿಯೇ ಗುಹೇಶ್ವರಾ. ॥೮೨೨॥

೧೫೧೭

ವರ್ಣವಿಲ್ಲದ ಲಿಂಗಕ್ಕೆ ರೂಪಪ್ರತಿಷ್ಠೆಯ ಮಾಡುವರು.
ಪ್ರಳಯವಿಲ್ಲದ ಲಿಂಗಕ್ಕೆ ಪ್ರಾಣಪ್ರತಿಷ್ಠೆಯ ಮಾಡುವರು.
ನುಡಿಯಬಾರದ ಲಿಂಗಕ್ಕೆ ಜಪಸ್ತೋತ್ರ ಪೂಜೆಯ ಮಾಡುವರು.
ಮುಟ್ಟಬಾರದ ಲಿಂಗಕ್ಕೆ ಕೊಟ್ಟು ಕೊಂಡಾಡಿಹೆವೆಂಬರು.
ಬೊಟ್ಟಿಡಲು ಎಡೆಯಿಲ್ಲದ ಲಿಂಗವ ಮುಟ್ಟಿ
ಪೂಜಿಸಿಹೆವೆಂಬ ಭ್ರಷ್ಟರ ನೋಡಾ ಗುಹೇಶ್ವರಾ. ॥೮೨೩॥

೧೫೧೮

ವಸುಧೆಯ ಮುಟ್ಟದೆ ರಸವ ಒಸರಲೀಯದೆ
ರಸದಲ್ಲಿ ಕಟ್ಟಬಲ್ಲಡೆ ಅದು ಯೋಗ.
ಹೊರಗಿದ್ದ ರಸವ ಕಟ್ಟಬಲ್ಲೆವೆಂಬರೆಲ್ಲಾ

ಅಂಜನಸಿದ್ಧರಾಗಿ ಹೋದರು.
ಸುಷುಮ್ನಸೂಕ್ಷ್ಮನಿಧಿಯ ಮಧ್ಯದ ಕೂಪ ಕಂಭದ ಮೇಲೆ
ಪಂಚೇಂದ್ರಿಯವೆಂಬ ಗುಹ್ಯವ ತೊಡೆದು ರಸವ ಕಟ್ಟಬಲ್ಲ
ಗುಹೇಶ್ವರನ ಶರಣ ಚನ್ನಬಸವಣ್ಣಂಗೆ ನಮೋ ನಮೋ ಎನುತಿರ್ದೆನು. ॥೮೨೪॥

೧೫೧೯

ವಾಗ್ಬ್ರಹ್ಮಿಗಳೆಲ್ಲರು ಪಡುವ ಪಾಟ ನೋಡಿ ನಮ್ಮ ಭಕ್ತರು,
ತ್ಯಾಗಾಂಗದಲ್ಲಿ, ಇಷ್ಟ ಪ್ರಾಣ ಭಾವಕ್ಕೆ ಬಾಹ್ಯ ಪದಾರ್ಥರೂಪವ
ಈಕ್ಷಣ ಜ್ಞಾನಸ್ಪರ್ಶದಿಂದ ಅರ್ಪಿಸಿ ದೇಹಪ್ರಸಾದಿಗಳಾಗಿ
ಚರಶೇಷದಲ್ಲಿ ಇಷ್ಟಲಿಂಗಪೂಜಕರಾಗಿ ಅನಿಷ್ಟವ ಪರಿಹರಿಸಿದರು.
ಭೋಗಾಂಗದಲ್ಲಿ ಇಷ್ಟ ಪ್ರಾಣ ಭಾವಕ್ಕೆ ದೇಹಪದಾರ್ಥರೂಪವ
ರೂಪು ರುಚಿ ತೃಪ್ತಿಯಿಂದ ಅರ್ಪಿಸಿ ಪ್ರಾಣಪ್ರಸಾದಿಗಳಾಗಿ
ಲಿಂಗಶೇಷದಲ್ಲಿ ಪ್ರಾಣಲಿಂಗ ನೈಷ್ಠಿಕರಾಗಿ ವಾಯುಗುಣವಿಕಾರವ ಕೆಡಿಸಿದರು.
ಯೋಗಾಂಗದಲ್ಲಿ ಇಷ್ಟ ಪ್ರಾಣ ಭಾವಕ್ಕೆ ವಾಯು ಪದಾರ್ಥರೂಪವ
ಸ್ಥೂಲ ಸೂಕ್ಷ್ಮಕಾರಣದಿಂದ ಅರ್ಪಿಸಿ ಮಹಾಪ್ರಸಾದಿಗಳಾಗಿ
ಗುರುಶೇಷದಲ್ಲಿ ಮನೋಗುಣ ವಿಕಾರ ಪರಿಹರಿಸಿದರು
ಗುಹೇಶ್ವರಲಿಂಗದಲ್ಲಿ. ॥೮೨೫॥

೧೫೨೦

ವಾಙ್ಮನಕ್ಕತೀತವಾದ ಪರಶಿವನು(ನೆ?) ಪರಮಾತ್ಮಸ್ವರೂಪನಾಗಿ
ವಿಶ್ವವೆಂಬ ನಾಣ್ಣುಡಿಯ ತೆರೆಯ ಸೀರೆಯ ಮರೆಯಲ್ಲಿ.
ಸಕಲ ಭೋಗಾದಿಭೋಗಂಗಳ ಭೋಗಿಸುತಿಪ್ಪಿರಿ.
ಗುಹೇಶ್ವರಾ ನಿಮ್ಮ ನಿಲವಿನ ಪರಿಣಾಮದ ಸುಖವ ನೀವೆ ಬಲ್ಲಿರಿ. ॥೮೨೬॥

೧೫೨೧

ವಾಚಾತೀತಂ ಮನೋತೀತಂ
ಭಾವಾತೀತಂ ಜ್ಞಾನಾತೀತಂ ನಿರಂಜನಂ
ಅಣೋರಣೀಯಾನ್ ಮಹತೋಮಹೀಯಾನ್
ಎಂದೆನಿಸುವ ಅತಿಶಯಬ್ರಹ್ಮವು.
ದಿವ್ಯ ಜ್ಞಾನವೆಂಬ ಭಕ್ತಿಮಂದಿರಕ್ಕೆ ಕರ್ತೃವಾದ
ಈಶ್ವರ–ಗುಹೇಶ್ವರ. ॥೮೨೭॥

೧೫೨೨

ವಾರವೇಳು, ಜಾತಿ ಹದಿನೆಂಟೆಂದು ನುಡಿವ ಪಾತಕರ ನುಡಿಯ ಕೇಳಲಾಗದು
ಅದೆಂತೆಂದಡೆ:
ವಾರವೆರಡು, ಜಾತಿಯೆರಡು, ಭವಿಯೊಂದು ಕುಲ, ಭಕ್ತನೊಂದು ಕುಲ.
ಇಂತೀ ಎಂಬತ್ತು ನಾಲ್ಕು ಲಕ್ಷ ಜೀವಕ್ಕೆ ಜೀವನವೇ ಆಹಾರ.
ಜೀವ ತಪ್ಪಿಸಿ ಜೀವಿಸಬಾರದು.
'ಯಥಾ ಮಂತ್ರ ತಥಾ ಸಿದ್ಧಿ'ಯೆಂದು ಲಿಂಗಕ್ಕರ್ಪಿತವ ಮಾಡಿಕೊಂಬುದೆ ಶುದ್ಧ,
ಉಳಿದಾದುದೆಲ್ಲ ಜೀವನ್ಮಯ ಗುಹೇಶ್ವರ. ॥೮೨೮॥

೧೫೨೩

ವಾರಿಕಲ್ಲ ಪುತ್ಥಳಿಯ ಅಪ್ಪು ಕೊಂಡಂತಾಯಿತ್ತು.
ಅಗ್ನಿಪುರುಷನ ಮುಸುಕ ತೆಗೆದ ಕರ್ಪುರದಂತಾಯಿತ್ತು.
ಕತ್ತಲೊಳಗೆ ರವಿಯ ಬೆಳಗು ಹೊಕ್ಕಂತಾಯಿತ್ತು.
ಗುಹೇಶ್ವರನ ಶರಣ ಮಡಿವಾಳ ಮಾಚಿತಂದೆಯ ಕೃಪೆಯಿಂದ
ಬಸವಣ್ಣಾ ನಿನ್ನ ಕಂಡೆನು.
ನಿನ್ನನ್ನು ಮಡಿವಾಳನನು ನೀನೆಂದೆ ಕಂಡೆನಯ್ಯಾ. ॥೮೨೯॥

೧೫೨೪

ವಾರಿ ಬಲಿದು ವಾರಿಕಲ್ಲಾದಂತೆ ಶೂನ್ಯವೆ ಸ್ವಯಂಭುವಾಯಿತ್ತು.
ಆ ಸ್ವಯಂಭುಲಿಂಗದಿಂದಾಯಿತ್ತು ಮೂರ್ತಿವತ್ತು,
ಆ ಮೂರ್ತಿಯಿಂದಾಯಿತ್ತು ವಿಶ್ವೋತ್ಪತ್ತಿ,
ಆ ವಿಶ್ವೋತ್ಪತ್ತಿಯಿಂದಾಯಿತ್ತು ಸಂಸಾರ,
ಆ ಸಂಸಾರದಿಂದಾಯಿತ್ತು ಮರವೆ.
ಆ ಮರವೆಯೆಂಬ ಮಹಾಮಾಯೆ ವಿಶ್ವವ ಮುಸುಕಿದಲ್ಲಿ
ನಾ ಬಲ್ಲೆ, ಬಲ್ಲಿದರೆಂಬ ಅರುಹಿರಿಯರೆಲ್ಲಾ
ತಾಮಸಕ್ಕೊಳಗಾಗಿ ಮೀನಕೇತನನ ಬಲೆಗೆ ಸಿಲುಕಿ
ಮಾಯೆಯ ಬಾಯ ತುತ್ತಾದರಲ್ಲಾ ! ಗುಹೇಶ್ವರಾ. ॥೮೩೦॥

೧೫೨೫

ವಿಚಾರವೆಂಬುದು ಸಂದೇಹಕ್ಕೊಳಗು ನೋಡಾ.
ವಿಚಾರಿಸುವನ್ನಕ್ಕರ ನೀನಾರೆಂಬುದನೆತ್ತ ಬಲ್ಲೆ ?

ಮರುಳೆ ವಾಙ್ಮನೋತೀತವಾದ ಘನವು ವಿಚಾರಕ್ಕೆ ನಿಲುಕುವುದೆ ?
ಗುಹೇಶ್ವರನೆಂಬ ಲಿಂಗವು ತನ್ನ ತಿಳಿದು ನೋಡಿಹೆನೆಂಬವರ[ನು]
ವಿಚಾರವೆಂಬ ಬಲೆಯಲ್ಲಿ ಕೆಡಹಿದನು. ||೮೩೧||

೧೫೨೬

ವಿಭೂತಿ, ಆವ ಭೂಷಣದೊಳಗು ?
ಪುಲಿಯ ಚರ್ಮ ಆವ ವಸ್ತ್ರದೊಳಗು ?
ಖಟ್ವಾಂಗ ಆವ ಆಯುಧದೊಳಗು ?
ನೀ ಇಡುವುದು ಇಂತುಟು ನೀ ಹೊದೆವುದು ಇಂತುಟು
ನೀ ಹಿಡಿವುದು ಇಂತುಟು,
ನೀ ಕೊಡುವುದು ಇಂದ್ರಪದವಿ ಗುಹೇಶ್ವರಾ. ||೮೩೨||

೧೫೨೭

ವಿಶ್ವಾಸದಿಂದ ಭಕ್ತನಾಗಿ, ಆ ವಿಶ್ವಾಸದೊಳಗಣ ನೈಷ್ಠೆಯಿಂದ ಮಹೇಶ್ವರನಾಗಿ,
ಆ ನೈಷ್ಠೆಯೊಳಗಣ ಸಾವಧಾನದಿಂದ ಪ್ರಸಾದಿಯಾಗಿ,
ಆ ಸಾವಧಾನದೊಳಗಣ ಸ್ವಾನುಭಾವದಿಂದ ಪ್ರಾಣಲಿಂಗಿಯಾಗಿ,
ಆ ಸ್ವಾನುಭಾವದೊಳಗಣ ಅರಿವಿನಿಂದ ಶರಣನಾಗಿ,
ಆ ಅರಿವು ನಿಜದಲ್ಲಿ ಸಮರಸಭಾವವನ್ನೈದಿ ನಿರ್ಭಾವಪದದೊಳು ನಿಂದ ಭೇದವೇ
ಐಕ್ಯಸ್ಥಲ ಕಾಣಾ ಗುಹೇಶ್ವರಾ. ||೮೩೩||

೧೫೨೮

ವೀರಧಾರುಣಿಯೊಳಗೆ ನಾರಿ ಶೃಂಗಾರವ ಮಾಡಿ
ಈರೇಳು ಭುವನವ ಅಮಳೋಕ್ಯವ ಮಾಡಿ
ಬಿಂದು ಶಕ್ತಿಯ ಭೇದ ಸಂದ ಯೋಗದ ಸುಖವ
ತಂದು ಮೂರ್ತಿಗೊಳಿಸಿದವರಾರು ?
ಒಂದೆರಡರ ನುಡಿಯ ಮತ್ತೊಂದು ಗ್ರಹಿಸಿತ್ತ ಕಂಡೆ.
ಬಿಂದುವಿನ ರಸದ ಪರೀಕ್ಷೆಯ ಭೇದವ
ಚಂದ್ರಕಾಂತದ ಗಿರಿಗೆ(ಯ?) ಅರುಣ ಚಂದ್ರರೊಡನೆ
ಇಂಬಿನಲ್ಲಿಪ್ಪ ಪರಿಯ ನೋಡಾ !
ಅಂಗೈಯ ತಳದೊಳು ಮೊಲೆ ಕಂಗಳಲ್ಲಿ ಕರಸನ್ನೆ
ಇಂಬಿನಲ್ಲಿ ನೆರೆವ ಸುಖ ಒಂದೆ !
ಆದಿ ಅನಾದಿಯ ಪ್ರತಿಬಿಂಬ ಇಂದೆನಗೆ ತೋರಿತ್ತು.
ಗುಹೇಶ್ವರನ ಶರಣ ಚೆನ್ನಬಸವಣ್ಣಂಗೆ ಶರಣೆನುತಿರ್ದೆನು. ||೮೩೪||

೧೫೨೯

ವೇದಂಗಳೆಂಬವು ಬ್ರಹ್ಮನ ಬೂತಾಟ.
ಶಾಸ್ತ್ರಂಗಳೆಂಬವು ಸರಸ್ವತಿಯ ಗೊಡ್ಡಾಟ.
ಆಗಮಗಳೆಂಬವು ಋಷಿಯ ಮರುಳಾಟ.
ಪುರಾಣಗಳೆಂಬವು ಪೂರ್ವದವರ ಗೊಡ್ಡಾಟ (ಒದ್ದಾಟ?)
ಇಂತು ಇವನು ಅರಿದವರ ನೇತಿಗಳೆದು
ನಿಜದಲ್ಲಿ ನಿಂದಿಪ್ಪಾತನೆ ಗುಹೇಶ್ವರನಲ್ಲಿ ಅಚ್ಚಲಿಂಗೈಕ್ಯನು ! ||೮೩೫||

೧೫೩೦

ವೇದ ಘನವೆಂಬುದೊಂದು ಸಂಪಾದನೆ.
ಶಾಸ್ತ್ರ ಘನವೆಂಬುದೊಂದು ಸಂಪಾದನೆ.
ಪುರಾಣ ಘನವೆಂಬುದೊಂದು ಸಂಪಾದನೆ.
ಆಗಮ ಘನವೆಂಬುದೊಂದು ಸಂಪಾದನೆ.
ಅಹುದೆಂಬುದೊಂದು ಸಂಪಾದನೆ.
ಅಲ್ಲವೆಂಬುದೊಂದು ಸಂಪಾದನೆ.
ಗುಹೇಶ್ವರನೆಂಬ ಮಹಾಘನದ
ನಿಜಾನುಭಾವಸಂಪಾದನೆಯ ಅರಿಯದ ಕಾರಣ
ಹಲವು ಸಂಪಾದನೆಗಳಾದವು. ||೮೩೬||

೧೫೩೧

ವೇದ ಘನವೆಂಬೆನೆ, ವೇದ ನಾದದೊಳಗಡಗಿತ್ತು.
ನಾದ ಘನವೆಂಬೆನೆ, ನಾದ ಬಿಂದುವಿನೊಳಗಡಗಿತ್ತು.
ಬಿಂದು ಘನವೆಂಬೆನೆ, ಬಿಂದು ಅಂಗದೊಳಗಡಗಿತ್ತು.
ಅಂಗ ಘನವೆಂಬೆನೆ, ಅಂಗ ಲಿಂಗದೊಳಗಡಗಿತ್ತು.
ಲಿಂಗ ಘನವೆಂಬೆನೆ, ಲಿಂಗ ನಿಶ್ಚಿಂತದೊಳಗಡಗಿತ್ತು.
ನಿಶ್ಚಿಂತ ಘನವೆಂಬೆನೆ, ನಿಶ್ಚಿಂತ ನಿರಾಳದೊಳಗಡಗಿತ್ತು.
ನಿರಾಳ ಘನವೆಂಬೆನೆ, ನಿರಾಳ ನಿರೂಪದೊಳಗಡಗಿತ್ತು.
ನಿರೂಪ ನಿಃಕಳಂಕ ನಿಃಶೂನ್ಯ ನಿರಂಜನ ಪರಾಪರ ನೀನೇ
ಗುಹೇಶ್ವರಾ. ||೮೩೭||

೧೫೩೨

ವೇದ ದೈವವೆಂದು ನುಡಿವರು, ಶಾಸ್ತ್ರ ದೈವವೆಂದು ನುಡಿವರು.
ಪುರಾಣ ದೈವವೆಂದು ನುಡಿವರು, ಕಲ್ಲು ದೈವವೆಂದು ನುಡಿವರು.

ಕಾಷ್ಠ ದೈವವೆಂದು ನುಡಿವರು. ಪಂಚಲೋಹ ದೈವವೆಂದು ನುಡಿವರು.
ಇವರೆಲ್ಲ ಸಕಲದಲಾದ ಸಂದೇಹವನೆ ಪೂಜಿಸಿ ಸತ್ತು ಹೋದರಲ್ಲಾ !
ಸಮಸ್ತ ಪ್ರಾಣಿಗಳೂ–ತಾಯನರಿಯದ ತರ್ಕಿಗಳು,
ತಂದೆಯನರಿಯದ ಸಂದೇಹಿಗಳು.
ತನು ಪೃಥ್ವಿಯಿಂದಲಾಯಿತ್ತು ಮನ ವಾಯುವಿನಿಂದಲಾಯಿತ್ತು.
ಕಲ್ಲು ಕಾಷ್ಠ ಸಕಲ–ನಿಷ್ಕಲದಿಂದಲಾಯಿತ್ತು.
ವಾಯುವಾಧಾರದ ಪವನಸಂಯೋಗದ ಅನಾಹತ ಚಕ್ರದಿಂದ ಮೇಲಣ
ಆಜ್ಞಾಚಕ್ರದಲ್ಲಿ ನಿಂದು; ಅನಂತಕೋಟಿಬ್ರಹ್ಮಾಂಡಗಳ ಮೆಟ್ಟಿ–
ಕಾಯದ ಕಣ್ಣ ಮುಚ್ಚಿ, ಜ್ಞಾನದ ಕಣ್ಣ ತೆರೆದು ನೋಡಲ್ಕೆ,
ಅಲ್ಲಿ ಒಂದು ನಿರಾಕಾರ ಉಂಟು.
ಆ ನಿರಾಕಾರದಲ್ಲಿ ನಿಂದು ನಿರ್ಣಯಿಸಿ ನೋಡಲ್ಕೆ,
ಅಲ್ಲಿ ಒಂದು ನಿಶ್ಶೂನ್ಯವುಂಟು.
ಆ ನಿಶ್ಶೂನ್ಯದಲ್ಲಿ ನಿಂದು ನಿಶ್ಚಯಿಸಿ ನೋಡಲ್ಕೆ,
ಕತ್ತಲೆಯಲ್ಲ ಬೆಳಗಲ್ಲ ಬಚ್ಚಬರಿಯ ಬಯಲು ಗುಹೇಶ್ವರಾ ! ॥ ೮೩೮॥

೧೫೩೩

ವೇದಶಾಸ್ತ್ರ ಪುರಾಣ ಆಗಮಂಗಳೆಲ್ಲವೂ ಐವತ್ತೆರಡಕ್ಷರದೊಳಗು
ಐವತ್ತೆರಡಕ್ಷರಂಗಳೆಲ್ಲವು ಒಂದು ಜಿಹ್ವೆಯೊಳಗು.
ಆ ಜಿಹ್ವೆ ಮನದೊಳಗು, ಆ ಮನ ಪ್ರಾಣದೊಳಗು.
ಆ ಪ್ರಾಣ ನಾದದೊಳಗು, ಆ ನಾದ ಬ್ರಹ್ಮದೊಳಗು.
ಆ ನಾದಬ್ರಹ್ಮದ ಸಂಚವ ತಿಳಿದೊಡೆ,
ಗುಹೇಶ್ವರಲಿಂಗವು ತಾನೆ. ॥ ೮೩೯ ॥

೧೫೩೪

ವ್ರತಗೇಡಿ ವ್ರತಗೇಡಿ ಎಂಬರು,
ವ್ರತ ಕೆಡಲು ಅದೇನು ಹಾಲಂಬಿಲವೆ ?
ವ್ರತ ಕರಿದೊ ? ಬಿಳಿದೊ ?
ಕಟ್ಟಿದಾತ ಭಕ್ತನಪ್ಪನೆ ? ಕೆಡಹಿದಾತ ವೈರಿಯಪ್ಪನೆ ?
ಕಟ್ಟುವುದಕ್ಕೆ ಲಿಂಗವು ಒಳಗಾಗಬಲ್ಲುದೆ ?
ಕೆಡಹುವುದಕ್ಕೆ ಲಿಂಗವು ಬೀಳಬಲ್ಲುದೆ ?
ಲಿಂಗವು ಬಿದ್ದಡೆ ಭೂಮಿ ಆನಬಲ್ಲುದೆ ?
ಲೋಕಾದಿ ಲೋಕಂಗಳುಳಿಯಬಲ್ಲವೆ ?

ಪ್ರಾಣಲಿಂಗ ಬಿದ್ದಿತ್ತೆಂಬ ದೂಷಕರ ನುಡಿಯ
ಕೇಳಲಾಗದು ಗುಹೇಶ್ವರಾ. ॥ ೮೪೦॥

೧೫೩೫

ಶಂಕಿನಿನಾಡಿಯ ಸಪುರನಾಳದೊಳಗಣ
ಸಣ್ಣ ಬಣ್ಣದ ಹೊಲಬ ಅಣ್ಣಗಳೆತ್ತ ಬಲ್ಲರು ?
ಲಿಂಗದ ಹಂಗಿನ ಪ್ರಾಣ, ಪ್ರಾಣದ ಹಂಗಿನ ದೇಹ,
ದೇಹದ ಹಂಗಿನ ಲಿಂಗವ, ಲಿಂಗವೆಂದು ಪೂಜಿಸಲು;–
ಆಳಿನಾಳಿನ ಕೀಳಾಳು ಪಟ್ಟಕ್ಕೆ ಸಲುವನೆ ?
ಗುಹೇಶ್ವರನೆಂಬ ಸಹಜದ ನಿಲವು
ಸಂತೆಯ ಪಸರಕ್ಕೆ ಬಂದಡೆ ನಾಚಿತ್ತೆನ್ನ ಮನವು ! ॥ ೮೪೧॥

೧೫೩೬

ಶತಕೋಟಿ ಲೋಕಂಗಳೆಲ್ಲ ಬಸವಣ್ಣನ ಕೋಡಿನಲ್ಲಿರ್ದವು ನೋಡಾ.
ಅತೀತವಪ್ಪ ಪರಶಿವನು,
ಬಸವಣ್ಣನ ಹಿಳಿಲ ಕೆಳಗೆ ಸೂಕ್ಷ್ಮರೂಪಾಗಿರ್ದನು ನೋಡಾ.
ಸಕಲ ಶ್ರುತಿ ಸ್ಮೃತಿಗಳೆಲ್ಲ ಬಸವಣ್ಣನ ಹೊಗಳಲರಿಯದೆ ಕೆಟ್ಟವು ನೋಡಾ.
ಕರ್ತನಾದನಲ್ಲದೆ ಭೃತ್ಯನಲ್ಲ, ಭಿನ್ನಾಣವ ಹೋಲಲರಿಯೆ
ಒಂದೆತ್ತಿಲ್ಲದಿರ್ದಡೆ ಕತ್ತಲೆಯಾಗದೆ ಈ ಜಗವೆಲ್ಲವು ?
ಹರಿವ ನದಿಗಳೆಲ್ಲ ಅಮೃತವಾದವು ಕಾಣಾ ಬಸವಣ್ಣ ನಿನ್ನಿಂದ !
ಹರಿಹನ್ನಿಕೋಟಿ ಯುಗಜುಗಂಗಳು ನಿನ್ನ ಉಸಿರಿನಲ್ಲಿ ಒತ್ತಿದಡೆ
ಬ್ರಹ್ಮಾಂಡಕ್ಕೆ ಹೋದವು, ಬಿಟ್ಟಡೆ ಬಿದ್ದವು, ಕಾದಡೆ ಬದುಕಿದವು.
ನೀನು ಹೊರೆವ ಯುಗಜುಗಂಗಳು ಒಂದು ತೃಣಮಾತ್ರವಾದ ಕಾರಣ
ನಿನ್ನ ಹಸುಮಕ್ಕಳವರೆನುತಿರ್ದೆನಯ್ಯಾ.
ನಿನ್ನ ಗೋಮಯದ ಷಡುಸಮ್ಮಾರ್ಜನೆಯ ಮೇಲೆ ಕುಳ್ಳಿರ್ದು
ಗುಹೇಶ್ವರಲಿಂಗವು ಶುದ್ಧನಾದನು, ಕಾಣಾ ಸಂಗನಬಸವಣ್ಣಾ ನಿನ್ನಿಂದ ! ॥೮೪೨॥

೧೫೩೭

ಶಬ್ದ ಸೂತಕವೆಂಬರು, ಶಬ್ದ ಸೂತಕ ಉಂಟೆ,
ತನ್ನಯ ಸಂದೇಹವಲ್ಲದೆ ?
ಗಾಳಿಗೆ ಧೂಳು ಲೇಪವಪ್ಪುದೆ ?
ಗುಹೇಶ್ವರಲಿಂಗಕ್ಕೆ ಆ ಭಾವವಿಲ್ಲ ಸಂಗನಬಸವಣ್ಣಾ ! ॥ ೮೪೩॥

೧೫೩೮

ಶರಣಂಗೆ ಉತ್ಪತ್ಯವಿಲ್ಲಾಗಿ ಸ್ಥಿತಿಯಿಲ್ಲ,
ಸ್ಥಿತಿಯಿಲ್ಲವಾಗಿ ಲಯವಿಲ್ಲ,
ಲಯವಿಲ್ಲವಾಗಿ ದೇಹನಾಮ ಪ್ರವರ್ತನೆಯಿಲ್ಲ,
ಇವಾವುದೂ ಇಲ್ಲದ ಕಾರಣ,
ಗುಹೇಶ್ವರಯ್ಯಾ, ನಿಮ್ಮ ಶರಣ ಬಚ್ಚಬರಿಯ ಬೆಳಗು. ॥೮೪೪॥

೧೫೩೯

ಶರಣನ ಒಡಲುಗೊಂಡ ಅಖಂಡಿತಲಿಂಗಕ್ಕೆ ಅರ್ಚನೆಯಿಲ್ಲ,
ಶರಣನ ಒಡಲುಗೊಂಡ ಅಚಲಿತಲಿಂಗಕ್ಕೆ ಅರ್ಪಿತವಿಲ್ಲ,
ಶರಣನ ಒಡಲುಗೊಂಡ ಅನುಪಮಲಿಂಗಕ್ಕೆ ಅವಧಾನವಿಲ್ಲ.
ಅದೇನು ಕಾರಣವೆಂದಡೆ:
ಶರಣನಿಂದಾದ ಅರ್ಚನೆ, ಶರಣನಿಂದಾದ ಅರ್ಪಿತ,
ಶರಣನಿಂದಾದ ಅವಧಾನ.
ಇದು ಕಾರಣ ಸಂದಳಿದು ಲಿಂಗವಾದ ಮತ್ತೆ
ಆನಂದವಲ್ಲದೆ ಅಣುಮಾತ್ರ ಕ್ರೀಯಿಲ್ಲ ಕಾಣಾ ಗುಹೇಶ್ವರಾ. ॥೮೪೫॥

೧೫೪೦

ಶರಣು ಶರಣಾರ್ಥಿ ಎಲೆ ತಾಯಿ,–
ಧರೆಯಾಕಾಶ ಮನೆಗಟ್ಟದಂದು
ಹರಿವ ಅನಿಲ ಅಗ್ನಿ ಜಲ ಮೊಳೆದೋರದಂದು ಹುಟ್ಟಿದಳೆಮ್ಮವ್ವೆ !
ಅದಕ್ಕೆ ಮುನ್ನವೆ ಹುಟ್ಟದೆ ಬೆಳೆದನೆಮ್ಮಯ್ಯ.
ಈ ಇಬ್ಬರ ಬಸಿರಲ್ಲಿ ಬಂದೆ ನಾನು !
ಎಮ್ಮ(ನ್ನ?) ತಂಗಿಯರೈವರು ಮೊರೆಗೆಟ್ಟು ಹೆಂಡಿರಾದರೆನಗೆ !
ಕಾಮಬಾಣ ತಾಗದೆ ಅವರ ಸಂಗವ ಮಾಡಿದೆನು.
ನಾ ನಿಮ್ಮ ಭಾವ ಅಲ್ಲಯ್ಯನು.
ನೀನೆನಗೆ ನಗೆವೆಣ್ಣು
ನಮ್ಮ ಗುಹೇಶ್ವರನ ಕೈವಿಡಿದು ಪರಮಸುಖಿಯಾಗಿ,
ಕಳವಳದ ಕಂದೆರವೆಯೇನು ಹೇಳಾ ? ॥೮೪೬॥

೧೫೪೧

ಶರೀರ ಉಳ್ಳನ್ನಕ್ಕ ನೆಳಲಿಲ್ಲದಿರಬಾರದು.
ಭೂಮಿಯುಳ್ಳನ್ನಕ್ಕ ಆಕಾಶವಿಲ್ಲದಿರಬಾರದು.

ನಾನುಳ್ಳನ್ನಕ್ಕ ನೀನಿಲ್ಲದಿರಬಾರದು
ಗುಹೇಶ್ವರಲಿಂಗವು ಶಕ್ತಿಗೆ ಒಳಗಾಯಿತ್ತಾಗಿ,
ಬಚ್ಚಬರಿಯ ಬಯಲೆಂಬುದಕ್ಕೆ ಉಪಮಾನವಿಲ್ಲ. ॥೮೪೭॥

೧೫೪೨

'ಶಿವ' ಎಂಬ ವಚನವ ಬಿಡದಿರಿ,
ಮಡದಿಯರ ಒಲುಮೆಯ ನಚ್ಚದಿರಿ,
ದರ್ಪಣದ ಒಪ್ಪವ ತಪ್ಪದಿರಿ,
ವಾಯುವ ಕಡೆಗಡೆಗೆ ತಿದ್ದದಿರಿ,
ಹಿಡಿವಡೆ ದೃಢವಾಗಿ ಹಿಡಿಯಿರೆಲವೊ,
ಗುಹೇಶ್ವರ ಸಿಕ್ಕಿದ ಅಲ್ಲಮಂಗೆ. ॥೮೪೮॥

೧೫೪೩

ಶಿವ, ಗುರುವೆಂದು ಬಲ್ಲಾತನೆ ಗುರು.
ಶಿವ, ಲಿಂಗವೆಂದು ಬಲ್ಲಾತನೆ ಗುರು.
ಶಿವ, ಜಂಗಮವೆಂದು ಬಲ್ಲಾತನೆ ಗುರು.
ಶಿವ, ಪ್ರಸಾದವೆಂದು ಬಲ್ಲಾತನೆ ಗುರು.
ಶಿವ, ಆಚಾರವೆಂದು ಬಲ್ಲಾತನೆ ಗುರು. –
ಇಂತೀ ಪಂಚವಿಧವೆ ಪಂಚಬ್ರಹ್ಮವೆಂದರಿದ
ಮಹಾ ಮಹಿಮ ಸಂಗನಬಸವಣ್ಣನು,
ಎನಗೆಯೂ ಗುರು, ನಿನಗೆಯೂ ಗುರು,
ಜಗವೆಲ್ಲಕ್ಕೆಯೂ ಗುರು ಕಾಣಾ ಗುಹೇಶ್ವರಾ. ॥೮೪೯॥

೧೫೪೪

ಶೀಲ ಶೀಲವೆಂದೇನೊ, ತನುಮನಧನವೆಂಬ ತ್ರಿಪುರವಿರಲು ?
ಆ ತ್ರಿಪುರಸಂಹಾರವ ಮಾಡಿ ಭಸ್ಮಾಂಗಿಯಾದಲ್ಲದೆ
ಶೀಲವಿಲ್ಲ ಕಾಣಾ ಗುಹೇಶ್ವರಾ. ॥೮೫೦॥

೧೫೪೫

ಶೂಲದ ಮೇಲಣ ತಲೆಯ ವೈಭೋಗವನಾರು ಬಯಸಿದಡೆಲ್ಲಿಯದು ?
ಉಂಬಡೆ ಒಡಲಿಲ್ಲ ಲಿಂಗಾರ್ಚನೆಯಿಲ್ಲ.

ಅಂಗಭೋಗಕ್ಕೆ ಕರಚರಣಂಗಳಿಲ್ಲ.
ಅಂಗವಿಲ್ಲೆಂಬ ಮಾತು ನಿಮಗೇಕೆ ? ಸುಡು, ಭಂಗ.
ಲಿಂಗ ನಿರಾಳ ಗುಹೇಶ್ವರಾ ! ॥೮೫೧॥

೧೫೪೬

ಶ್ರೀಗುರು ಲಿಂಗ ಜಂಗಮದ ಕರುಣ ಕಟಾಕ್ಷೆಯಿಂದ ದಶವಿಧ ಲಿಂಗಂಗಳ ಪಡೆದು
ಆ ಲಿಂಗನಿಷ್ಠಾಪರತ್ವದಿಂದ, ನಿನ್ನ ಪ್ರಾಣನ ಮಧ್ಯದಲ್ಲಿ ನೆಲಸಿರ್ಪ
ದಶವಿಧ ಚಿದ್ವಾಯುಗಳು, ದಶವಿಧ ಸುನಾದಗಳು, ದಶವಿಧಸತ್ಕರಣಂಗಳನ್ನು
ಮಹಾಜ್ಯೋತಿರ್ಮಯಲಿಂಗದತ್ತ ಮುಖಮಾಡಿ ನೋಡಲು
ಮಹಾಶರಣಗಣಮಾರ್ಗದ
ಬಟ್ಟಬಯಲ ನಿಜಾಚರಣೆ ದೊರೆವುದು ನೋಡ !
ಗುಹೇಶ್ವರ ಲಿಂಗದಲ್ಲಿ ಚನ್ನಬಸವಣ್ಣ. ॥೮೫೨॥

೧೫೪೭

ಶ್ರೀಗುರುವನರಿಯಲೆ ಬೇಕು, ಶ್ರೀಗುರುವನರಿಯಲೆ ಬೇಕು.
ಅಂತಲ್ಲದೆ ಸುಖವಿಲ್ಲಯ್ಯಾ, ಅಂತಲ್ಲದೆ ಸುಖವಿಲ್ಲಯ್ಯಾ.
ಶ್ರೀಗುರುವನರಿದಲ್ಲದೆ ಇಹಪರಸುಖವನರಿಯಬಾರದು.
ಅಂತಲ್ಲದೆ – ಶ್ರೀಗುರುವನು ಅರಿಯದವನೆ ಲಘು.
ಶ್ರೀಗುರುವನು ಅರಿದಂಗೆ ಶ್ರೀಗುರು ಗುಹೇಶ್ವರ. ॥೮೫೩॥

೧೫೪೮

ಶ್ರೀಗುರುವೆ ಎನಗೆ ಕಾಯವು, ಶ್ರೀಗುರುವೆ ಎನಗೆ ಪ್ರಾಣವು,
ಶ್ರೀಗುರುವೆ ಎನಗೆ ಇಹವು, ಶ್ರೀಗುರುವೆ ಎನಗೆ ಪರವು,
ಶ್ರೀಗುರುವೆ ಎನಗೆ ಗತಿಯು, ಶ್ರೀಗುರುವೆ ಎನಗೆ ಮತಿಯು,
ಶ್ರೀಗುರುಪಾದವೆ ಎನಗೆ ಘನತರ ಮುಕ್ತಿಗೆ ಕಾರಣವು.
ಗುಹೇಶ್ವರ ಗುಹೇಶ್ವರಾ, ನಿಮ್ಮಾಣೆ ಇದು ಸತ್ಯ. ॥೮೫೪॥

೧೫೪೯

ಶ್ರೀಗುರುಸ್ವಾಮಿ ಶಿಷ್ಯನ ಪೂರ್ವಾಶ್ರಯಮಂ ಕಳೆದು
ಪುನರ್ಜಾತನಂ ಮಾಡಿದ ಬಳಿಕ,
ಪಂಚಭೂತಕಾಯವ ಕಳೆದು
ಪ್ರಸಾದಕಾಯವ ಮಾಡಿದ ಬಳಿಕ.

ವಾಯುಪ್ರಾಣಿಯ ಕಳೆದು
ಲಿಂಗಪ್ರಾಣಿಯ ಮಾಡಿದ ಬಳಿಕ,
ಎಲ್ಲಿಯ ಕುಲಸೂತಕ. ಎಲ್ಲಿಯ ಛಲಸೂತಕ,
ಎಲ್ಲಿಯ ತನುಸೂತಕ ಎಲ್ಲಿಯ ಮನಸೂತಕ
ಎಲ್ಲಿಯ ನೆನಹುಸೂತಕ ಎಲ್ಲಿಯ ಭಾವಸೂತಕ.
– ಇವನೆಂತೂ ಹಿಡಿಯಲಾಗದು. ಸದ್ಭಕ್ತನು.
ಕುಲಸೂತಕವುಳ್ಳನ್ನಕ್ಕರ ಭಕ್ತನಲ್ಲ
ಛಲಸೂತಕವುಳ್ಳನ್ನಕ್ಕರ ಮಹೇಶ್ವರನಲ್ಲ
ತನುಸೂತಕವುಳ್ಳನ್ನಕ್ಕರ ಪ್ರಸಾದಿಯಲ್ಲ
ಮನಸೂತಕವುಳ್ಳನ್ನಕ್ಕರ ಪ್ರಾಣಲಿಂಗಿಯಲ್ಲ
ನೆನಹುಸೂತಕವುಳ್ಳನ್ನಕ್ಕರ ಶರಣನಲ್ಲ
ಭಾವಸೂತಕವುಳ್ಳನ್ನಕ್ಕರ ಐಕ್ಯನಲ್ಲ
ಇಂತೀ ಸೂತಕವ ಮುಂದುಗೊಂಡಿಪ್ಪವರ
ಮುಖವ ನೋಡಲಾಗದು ಗುಹೇಶ್ವರ. ॥೮೫೫॥

೧೫೫೦

ಶ್ರೀಮನ್ಮನದ ಕೊನೆಯಿಂದ ನೆನೆದ ನೆನಹು
ಜನನ ಮರಣ ನಿಲಿಸಿತ್ತು.
ಜ್ಞಾನಜ್ಯೋತಿಯ ಉದಯ, ಭಾನುಕೋಟಿಯ ಮೀರಿ ಸ್ವಾನುಭಾವದುದಯ.
ಜ್ಞಾನಶೂನ್ಯದೊಳಡಗಿದ ಭೇದವನು
ಏನೆಂಬೆನು ನೋಡಾ ಗುಹೇಶ್ವರಾ ? ॥೮೫೬॥

೧೫೫೧

ಶ್ರುತಿಯ ನಂಬದಿರೊ. ಶ್ರುತಿಯ ನಂಬದಿರೊ
ಶ್ರುತಿತತಿಗಳು ಮುನ್ನವೆ ಶಿವನಡಿಯ ಕಾಣದೆ
ಶ್ರುತಿ 'ಚಕಿತಮಭಿದತ್ತೇ' ಎನುತ್ತ
ಮುನ್ನವೆ ಅರಸಿ ತೊಳಲಿ ಬಳಲುತ್ತೈದಾವೆ.
ಶ್ರುತಿ ಹೇಳಿದತ್ತ ಹರಿಹರಿದು ಬಳಲದಿರೊ,
ಶೂನ್ಯಕ್ಕೆ ತಲೆವಾರನಿಕ್ಕದಿರೊ,
ವಸ್ತು ಭ್ರೂಮಧ್ಯದಲುಂಟೆಂದು ನೆನೆಯದಿರೊ.
ವಸ್ತು ಭ್ರೂಮಧ್ಯದಲುಂಟೆಂದು ಭ್ರಮಿಸದಿರೊ.
ವಸ್ತು ಬ್ರಹ್ಮರಂಧ್ರದಲುಂಟೆಂದು ಹೊಲಬುಗೆಡದಿರೊ.
ವಸ್ತುವ ಕಾಬಡೆ.

ಎನ್ನ ಸದ್ಗುರು ಅನಿಮಿಷದೇವನಂತೆ
ನಿನ್ನ ಕರಸ್ಥಲದಲ್ಲಿ ನಿಶ್ಚಯಿಸಿ, ವಸ್ತುನಿಶ್ಚಯವ ಕಂಡು
ನಮ್ಮ ಗುಹೇಶ್ವರಲಿಂಗದಲ್ಲಿ ನಿಬ್ಬೆರಗಾಗೊ ಮರುಳೆ. ॥೮೫೭॥

೧೫೫೨

ಶ್ವೇತನ ಕರೆಯಬಂದ ದೂತರು,
ರಂಭೆಯ ಕಣ್ಣ ಮುಂದೆ ಅಲೆಯುತ್ತಿರಲು ಇನ್ನೇಕೆ ಮರವೆ ?
ಇಹಕ್ಕೆ ದಿಟ ಪರಕ್ಕೆ ಪರಿಣಾಮ;
ಪಯಣಕ್ಕೆ ನಿಶ್ಚಯ ಕಾಣಾ ಗುಹೇಶ್ವರಾ. ॥೮೫೮॥

೧೫೫೩

[ಶ್ವೇತ ಪೀತ ಕಪೋತ ಹರಿತ ಕೃಷ್ಣ] ಮಾಣಿಕವೆಂಬ ಆರು ವರ್ಣ.
ಅದಕ್ಕೆ ಬ್ರಹ್ಮ ವಿಷ್ಣು ರುದ್ರ ಈಶ್ವರ ಸದಾಶಿವ ಶ್ರೀಗುರು – ಎಂಬ
ಆರು ಅಧಿದೇವತೆ, ಈ ಭೇದವನೆಲ್ಲ ತಿಳಿದು ನೋಡಿ,
ಉನ್ಮನಿಯ ಜ್ಯೋತಿಯ ಬ್ರಹ್ಮರಂಧ್ರದ ಸಹಸ್ರದಳ ಪದ್ಮದ
ಅಮೃತಬಿಂದುವಿನೊಳಗಣ ಪ್ರಾಣವೆ ರೂಪಾಗಿ,
ಪ್ರಾಣಲಿಂಗದಲ್ಲಿ ಒಡಗೂಡಬಲ್ಲ ಗುಹೇಶ್ವರಾ ನಿಮ್ಮ ಶರಣ. ॥೮೫೯॥

೧೫೫೪

ಷಡುದರುಶನ ಜ್ಞಾನವಲ್ಲದೆ [ಮತ್ತೆ] ಇಲ್ಲೆಂಬ
ಜ್ಞಾನಿಗಳೆಲ್ಲರೂ ಚಾಂಡಾಲಿಗಳು,
ಬ್ರಹ್ಮಚಾರಿಗಳೆಲ್ಲರೂ ಉದ್ದೇಶಿಗಳು,
ಶಿವಯೋಗಿಗಳೆಲ್ಲರು ಅಂಧಕರು,
ಇಷ್ಟಲಿಂಗಸಂಬಂಧಿಕರೆಲ್ಲರೂ ಅವಿಚಾರಿಗಳು.
ಅವರಿವರ ಪರಿಯಲ್ಲ ಗುಹೇಶ್ವರಾ,
ನಿಮ್ಮ ಶರಣರ ಪರಿ ಬೇರೆ ! ॥೮೬೦॥

೧೫೫೫

ಷಡೂರ್ಮಿಯಿಲ್ಲ ಷಡ್ವರ್ಗವಿಲ್ಲ
ನಾನೆಂಬುದಿಲ್ಲ ನೀನೆಂಬುದಿಲ್ಲ.
ಏನೆಂಬುದೇನೂ ಇಲ್ಲದಿಹುದೆ, ಚಿದಹಂಕಾರದ ಲಿಂಗೈಕ್ಯವಯ್ಯಾ
ಗುಹೇಶ್ವರಾ. ॥೮೬೧॥

೧೫೫೬

ಸಂಗದಿಂದಾಯಿತ್ತು ತನು, ಆ ತನುವಿನಿಂದಾಯಿತ್ತು ಮರವೆ,
ಆ ಮರವೆಯಿಂದಾಯಿತ್ತು ನೋಡಾ 'ನೀ' 'ನಾ' ಎಂಬುದು.
ನೀನೆಂಬ ಬಹಿರಂಗವಂತಿರಲಿ, ನಾನೆಂಬ ಅಂತರಂಗವಂತಿರಲಿ–
ಈ ಉಭಯ ಭಾವವಲ್ಲದೆ,
ನಿನ್ನಿಂದ ನಿನ್ನನರಿದಹೆನೆಂಬುದು ವಿಪರೀತಭಾವ !
ಈ ಅರಿವು ಮರವೆಯಾಟದ ಭ್ರಾಂತು ಬಿಡದು.
ಗುಹೇಶ್ವರಲಿಂಗವು ನಿನ್ನಲ್ಲಿ ನಿಂದ ಪರಿ ಎಂತು ಹೇಳಾ
ಸಂಗನಬಸವಣ್ಣಾ ? ॥೮೬೨॥

೧೫೫೭

ಸಂಗ್ರಾಮ ಒಡ್ಡಿದಲ್ಲಿ ಹಂದೆ ಗೆಲಬಲ್ಲನೆ ಹೇಳಾ ?
ನಿಂದ ನಿಲವಿನ ಘನಮಡುವ, ಕಂದ ಈಸಾಡಬಲ್ಲನೆ ಹೇಳಾ ?
ಗುಹೇಶ್ವರನೆಂಬ ನಿರಾಳದ ಘನವ, ಪಂಚೇಂದ್ರಿಯಕ ಬಲ್ಲನೆ ಹೇಳಾ ? ॥೮೬೩॥

೧೫೫೮

ಸಂಗಿಯಲ್ಲದ ನಿಸ್ಸಂಗಿಯಲ್ಲದ,
ರೂಪಿಲ್ಲದ ನಿರೂಪಿಲ್ಲದ ಸುಳುಹು ನೋಡಾ !
ದ್ವೈತವಿಲ್ಲದ ಅದ್ವೈತವಿಲ್ಲದ,
ಸೀಮೆಯಿಲ್ಲದ ನಿಸ್ಸೀಮೆಯಿಲ್ಲದ ಸುಳುಹು ನೋಡಾ !
ನಡೆಯಿಲ್ಲದ ನುಡಿಯಿಲ್ಲದ ಒಡಲಿಲ್ಲದ ಸುಳುಹು ನೋಡಾ !
ಕಡೆ ಮೊದಲೆಡೆದೆರಹಿಲ್ಲದಖಂಡ ಗುಹೇಶ್ವರಲಿಂಗ
ನಿರಾಳ ನಿಜೈಕ್ಯ ನೋಡಾ. ॥೮೬೪॥

೧೫೫೯

ಸಂಸಾರವ ಬಿಟ್ಟೆನೆಂದು,
ನಿರಾಶಾಪದವ ಮಾಡಿ,
ತಲೆಯ ಬೋಳಿಸಿಕೊಂಡು,
ಕುದಿದು ಕೋಟಲೆಗೊಂಡು,
ಮನೆ ಮನೆ ತಪ್ಪದೆ ಭಿಕ್ಷವ ಬೇಡಿ,
ಉಂಡು, ಎದ್ದು ಹೋಗಿ ತತ್ವವ ಬೋಧಿಸಿ,
ಉದರವ ಹೊರೆವಂದು ಮುನ್ನವಿಲ್ಲ ಮರುಳಾ ?

ಕಾಡಿ ಬೇಡಿ ಹಾಡಿ ಒಡಲ ಹೊರೆವಂಗೆ,
ಮುಕ್ತಿಯುಂಟೆ ಮರುಳಾ ?
ಜಂಗಮದಂಗವು ನಿರ್ಗಮನಿ,
ಭಕ್ತಪ್ರಿಯ ನಮ್ಮ ಗುಹೇಶ್ವರಲಿಂಗದಲ್ಲಿ
ಜಂಗಮದ ನಡೆಯಿಲ್ಲ ಕಾಣಾ, ಎಲೆ ಮರುಳಾ. ॥೬೬೫॥

೧೫೬೦

ಸಂಸಾರವೆಂಬ ಶರಿಧಿ ಅಡ್ಡಗಟ್ಟಲು,
ಅನುವನರಿದವಂಗೆ ಅಂಗವೆ ಹಡಗು, ಮನವೆ ಕೂಕಂಬಿಕಾರ.
ಜ್ಞಾನ–ಸುಜ್ಞಾನವೆಂಬ ಗಾಳಿ ತೀಡಲು, ಸುಲಕ್ಷಣದಿಂದ ಸಂಚರಿಸುತ್ತಿರಲು
ಬರ್ಪವು ಮೀನು, ಮೊಸಳೆ, ಅಪ್ಪುಗಿರಿ.–ಜತನ.
ಮೊತ್ತದ ಸಂಚಾರದ ಹಡಗು ತಾಗುತ್ತಿದೆ, ಎಚ್ಚತ್ತಿರು,
ಜಾಗ್ರ ಸ್ವಪ್ನ ಸುಷುಪ್ತಿಗಳಲ್ಲಿ ಮೈಮರೆಯದೆ.
ಕತ್ತಲೆ ದೆಸೆ ಅತ್ತಲೆ ಪೋಗು; ಉತ್ತರನಕ್ಷತ್ರದ ಪ್ರಭೆಯಿದೆ !
ಸೆಟ್ಟಿ ಜತನ ! ಪಟ್ಟಣವಿದೆ,–ಗುಹೇಶ್ವರಾ. ॥೬೬೬॥

೧೫೬೧

ಸಕಲವನೆಲ್ಲ ಲಿಂಗದೊಳಗೆ ತೋರಿದನು.
ಆ ಲಿಂಗದ ಬೆಳಗ ಸಕಲದೊಳಗೆ ತೋರಿದನು.
ಎನ್ನ ಮನಕ್ಕೆ ಅತಿಶಯವ ತೋರಿ ತೋರಿ ರಕ್ಷಿಸಿದನು.
ಎನ್ನೊಳಗೆ ತನ್ನ ತೋರಿದನು, ತನ್ನೊಳಗೆ ಎನ್ನ ತೋರಿದನು.
ಮತ್ತೆ ಎರಡುವನು ಏಕಮಾಡಿ
ಎನ್ನೊಳಗೆ ಗುಹೇಶ್ವರನಾದನು ಹೊರಗೆ ಮಹಾಲಿಂಗವಾಗಿ ನಿಂದನು,
ಶ್ರೀಗುರುಲಿಂಗ ಬಸವಣ್ಣನು. ॥೬೬೭॥

೧೫೬೨

ಸಕಳಸ್ಥಲದ ಲಿಂಗ ಮನಸ್ಥಲದಲ್ಲಿ ವೇದ್ಯವಾಗಿ,
ಮನಸ್ಥಲದ ಲಿಂಗ ಮಹಾಸ್ಥಲದಲ್ಲಿ ವೇದ್ಯವಾಗಿ,
ಆ ಮಹಾಸ್ಥಲವೇ ಎನ್ನ ಸರ್ವಾಂಗದಲ್ಲಿ ವೇದ್ಯವಾದ ಬಳಿಕ
ಇನ್ನು ಭಿನ್ನಭಾವಕ್ಕೆ ತೆರಹೆಂಬುದುಂಟೆ ?
ಗುಹೇಶ್ವರನೆಂಬ ಪ್ರಾಣಲಿಂಗವ ಬೆರಸಿ ಸಮರಸವಾದ ಬಳಿಕ
ಎರಡೆಂಬುದಿಲ್ಲ ನೋಡಾ ಚೆನ್ನಬಸವಣ್ಣ. ॥೬೬೮॥

೧೫೬೩

ಸಜ್ಜನಸನ್ನಹಿತವಾದ ಭಕ್ತಿ, ಹೊತ್ತಿಗೊಂದು ಪರಿಯುಂಟೆ ಹೇಳಾ ?
ಒಮ್ಮೆ ಅಹಂಕಾರ ಒಮ್ಮೆ ಕಿಂಕಿಲವೆ ?
ಮನಕ್ಕೆ ಮನ ಸಾಕ್ಷಿಯಾಗಿ ಮಾಡುವ ಭಕ್ತನಲ್ಲಿ
ಗುಹೇಶ್ವರನಿಪ್ಪನಲ್ಲದೆ,
ಪ್ರಪಂಚಿನೊಳಗಿಲ್ಲ ಕಾಣಾ ಸಂಗನಬಸವಣ್ಣಾ. ॥೮೬೯॥

೧೫೬೪

ಸತ್ತ ಬಳಿಕ ಲಿಂಗದೊಳಗಾದೆಹೆವೆಂಬುದು ಎತ್ತಣ ವಾರ್ತೆ ?
ಅದು ಹುಸಿ ನೋಡಾ.
ಸಾಯದ ಮುನ್ನ ನಿಜವನರಿದು ಸ್ವಯವಾಗಿ ನಡೆಯಬಲ್ಲಡೆ
ಗುಹೇಶ್ವರಲಿಂಗವನರಿದ ಶರಣರು ಒಲಿವರು ಕಾಣಾ
ಸಿದ್ಧರಾಮಯ್ಯಾ. ॥೮೭೦॥

೧೫೬೫

ಸತಿಯ ಕಂಡು ಬ್ರತಿಯಾದ ಬಸವಣ್ಣ.
ಬ್ರತಿಯಾಗಿ ಬ್ರಹ್ಮಚಾರಿಯಾದ ಬಸವಣ್ಣ.
ಬ್ರಹ್ಮಚಾರಿಯಾಗಿ ಭವಗೆಟ್ಟನಯ್ಯಾ ಬಸವಣ್ಣ.
ಗುಹೇಶ್ವರಾ ನಿಮ್ಮಲ್ಲಿ ಬಾಲಬ್ರಹ್ಮಚಾರಿಯಾದ ಬಸವಣ್ಣ ಒಬ್ಬನೇ. ॥೮೭೧॥

೧೫೬೬

ಸತ್ತು ಮುಂದೆ ದೇವರ ಕೂಡಿಹೆವೆಂಬಿರಿ,
ಸಾಯದ ಮುನ್ನ ಸತ್ತಿಪ್ಪಿರಿ.
ಎಂತಯ್ಯಾ ನಿಮ್ಮ ಲಿಂಗೈಕ್ಯದ ಪರಿ ?
ಎಂತಯ್ಯಾ ನಿಮ್ಮ ಪ್ರಮಥರ ಪರಿ ?
ಅಂಗದ ಅವಸ್ಥೆಯಲ್ಲದೆ ಲಿಂಗದ ಅವಸ್ಥೆ ಆರಿಗೂ ಇಲ್ಲ
ಗುಹೇಶ್ವರಾ. ॥೮೭೨॥

೧೫೬೭

ಸತ್ತು ಮುಂದೆ ದೇವರ ಕೂಡುವುದುಳ್ಳಡೆ.
ಸಾಯಲೇ ಬೇಕು. ಹಿಂದೆ ನೋಯಲೇಕಯ್ಯಾ ?

ತಮ್ಮಿಂದ ತಾವು ಸತ್ತು. ನಿಮ್ಮ ಮೇಲೆ ಇಡುವರು.
ಲೋಕದ ದುರ್ಜನವ ಹೊತ್ತೆ ಕಾಣಾ ಗುಹೇಶ್ವರಾ. ॥೮೭೩॥

೧೫೬೮

ಸತ್ಯವೂ ಇಲ್ಲ, ಅಸತ್ಯವೂ ಇಲ್ಲ.
ಸಹಜವೂ ಇಲ್ಲ. ಅಸಹಜವೂ ಇಲ್ಲ.
ನಾನೂ ಇಲ್ಲ, ನೀನೂ ಇಲ್ಲ.
'ಇಲ್ಲ' 'ಇಲ್ಲ' ಎಂಬುದು ತಾನಿಲ್ಲ
ಗುಹೇಶ್ವರನೆಂಬುದು ತಾ ಬಯಲು ! ॥೮೭೪॥

೧೫೬೯

ಸತ್ಯ ಶುದ್ಧ ದೇವರ ನಂಬಲರಿಯದೆ,
ಮಿಥ್ಯ ದೈವಂಗಳನೆ ನಂಬಿ,
ಸತ್ತು ಹೋದರು ನಿತ್ಯವನರಿಯದೆ.
ಎತ್ತಲೆಂತರಿಯರು ಗುಹೇಶ್ವರಲಿಂಗವನು. ॥೮೭೫॥

೧೫೭೦

ಸದ್ಯೋಜಾತ ಬದ್ಧಜ್ಞಾನಿ. ವಾಮದೇವ ಆತುರಜ್ಞಾನಿ.
ಅಘೋರ ಕೋಪಜ್ಞಾನಿ. ತತ್ಪುರುಷ ಕ್ಷಣಿಕಜ್ಞಾನಿ.
ಈಶಾನ್ಯ ಅತೀತಜ್ಞಾನಿ – [ಇದು] ಪರಿಯಲ್ಲ ನೋಡಾ.
ಗುಹೇಶ್ವರಲಿಂಗದಲ್ಲಿ ಅವಿರಳಜ್ಞಾನಿ ಚನ್ನಬಸವಣ್ಣ.
[ಆತನ] ಶ್ರೀಪಾದಕ್ಕೆ ನಮೋನಮೋ ಎಂಬೆನು. ॥೮೭೬॥

೧೫೭೧

ಸಮತೆ ಎಂಬ ಕಂಥೆ ತೊಟ್ಟು. ಸುಬುದ್ಧಿ ಎಂಬ ಟೊಪ್ಪರವನಿಕ್ಕಿ.
ವಿಷಯವೆಂಬ ಹಾವುಗೆಯ ಮೆಟ್ಟಿ. ತಮಂಧವೆಂಬ ಕುಳಿಯ ಬೀಳದೆ.
ಕ್ರೋಧವೆಂಬ ಕೊರಡ ಎಡಹದೆ. ಮದವೆಂಬ ಚೇಳ ಮೆಟ್ಟದೆ
ಗುಹೇಶ್ವರನ ಶರಣ ಬಂದೆನು.
ಭಕ್ತಿಭಿಕ್ಷವನಿಕ್ಕೈ ಸಂಗನಬಸವಣ್ಣಾ. ॥೮೭೭॥

೧೫೭೨

ಸಮಯವ ಬಿಡಬಹುದೆ ಅಯ್ಯಾ ?
ಅಟ್ಟ ಅಶನವಾದಡೂ ಕಲಸುವದಕ್ಕೆ ಕೈ, ಉಂಬುದಕ್ಕೆ ಬಾಯಿ ಬೇಕು.
ಉಂಬುದಿಲ್ಲಾ ಎಂದು ಸಂದೇಹವ ಹರಿದಲ್ಲಿ
ಸಮಯ ಒಂದೂ ಇಲ್ಲ ಎನಬೇಕು.
ಗುಹೇಶ್ವರನೆಂಬನ್ನಕ್ಕ.
ಬಂಧ–ಮೋಕ್ಷವನರಿಯಬೇಕು ಘಟ್ಟಿವಾಳಯ್ಯಾ. ॥೮೭೮॥

೧೫೭೩

ಸಮುದ್ರದೊಳಗೆ ನೊರೆ ತೆರೆಗಳು ನೆಗಳ್ದವೆಂದಡೆ
ತಾ ಸಮುದ್ರದಿಂದ ಅನ್ಯವಪ್ಪವೆ ?
ನಿರ್ವಿಕಾರ ನಿತ್ಯ ನಿರಂಜನ ನಿರ್ಗುಣ ಪರಿಪೂರ್ಣ ನಿರ್ವಿಕಲ್ಪ
ಪರಬ್ರಹ್ಮಶಿವನಿಂದ ಜಗತ್ತು ಉದಯಿಸಿತ್ತು ಎಂದಡೆ
ಶಿವನಿಂದ ಅನ್ಯವೆನಬಹುದೆ ?
ಇಂತಪ್ಪ ಅರಿವು, ನೀವು ಕೊಟ್ಟ ಸಮ್ಯಕ್ ಜ್ಞಾನಕ್ಕೆ
ಅರಿದಪ್ಪುದಯ್ಯಾ ಗುಹೇಶ್ವರಾ. ॥೮೭೯॥

೧೫೭೪

ಸರ್ವಶೂನ್ಯ ಆದಿ ಅನಾದಿ ಭಕ್ತಸ್ಥಲ.
ನಾದ ಬಿಂದು ಮಹೇಶ್ವರಸ್ಥಲ.
ಕಳೆ ಬೆಳಗು ಪ್ರಸಾದಿಸ್ಥಲ.
ಅರಿವು ನಿರವಯವು ಪ್ರಾಣಲಿಂಗಿಸ್ಥಲ.
ಜ್ಞಾನ ಸುಜ್ಞಾನ ಶರಣಸ್ಥಲ.
ಭಾವವಿಲ್ಲದ ಬಯಲು ಬಯಲಿಲ್ಲದ ಭಾವ ಆಗಮ್ಯದ ಐಕ್ಯಸ್ಥಲ–
ಇಂತೀ ಷಡುಸ್ಥಲದ ಕೊರಡ ಮೆಟ್ಟಿ ನಿಂದಂಗೆ
ಹೆಸರಿಲ್ಲ ಕುರುಹಿಲ್ಲ ತನಗೆ ತಾನಿಲ್ಲ ಗುಹೇಶ್ವರಾ. ॥೮೮೦॥

೧೫೭೫

ಸರ್ವಾತ್ಮ ಚೈತನ್ಯವಪ್ಪ ಜಂಗಮದ ಪರಿಯ ನೋಡಾ:
ಅಖಂಡಬ್ರಹ್ಮದ ಬಯಲೆಲ್ಲಾ ತಾನಾಗಿ. ಸುಳಿಯಲೆಡೆಯಿಲ್ಲದೆ ನಿರ್ಗಮನಿಯಾದಲ್ಲಿ
ಒಂದಾಸೆಯೊಳಗಿಲ್ಲದ ಅವಿರಳ ಜ್ಞಾನಿ !

ಕುರಿತೊಂದಕ್ಕೆ ಸುಳಿವವನಲ್ಲ, ಭಕ್ತಿಗಮ್ಯನು.
ಉಳಿದ ಗಮನದ ತುರೀಯವಿಲ್ಲದೆ ತನ್ನ ನಿರ್ಗಮನದ ಇರವು !
ಚತುರಾಕಾರದ ಭೂಮಿಯೆ ಸುಖತಲ್ಪ ಮಂಚ. ಆಕಾಶವೆ ಮೇಲುಕಟ್ಟು.
ಚಂದ್ರಸೂರ್ಯರೆ ಉಭಯ ಭಾಗದಲ್ಲಿ ಬೆಳಗುವ ಜ್ಯೋತಿ !
ಪರಿಣಾಮವೆ ತೃಪ್ತಿ, ದಿಕ್ಕುಗಳೆ ವಸನ, ಸದ್ಗುಣವಾಸನೆಯೆ ಪರಿಮಳ !
ನಕ್ಷತ್ರಂಗಳೆ ಪುಷ್ಪ, ಶಿವತತ್ವಕಾಂತಿಯೆ ಆವರಣ
ತ್ರಿಗುಣಕೂಟವೆ ತಾಂಬೂಲ; ಜ್ಞಾನಶಕ್ತಿಯ ಸಂಗ
ಪ್ರಣವನಾದಗೀತ[ದ] ಕೇಳಿಕೆ,–
ಇಂತೀ ಅಷ್ಟಭೋಗೈಶ್ವರ್ಯದಲ್ಲಿಪ್ಪ ರಾಜಯೋಗಿ ಚರಲಿಂಗ,
ನಿಶ್ಚಿಂತ ನಿರ್ವಾಣಿ ನಿರಂಜನ ನಿರ್ಮಾಯ ನಿರ್ವ್ಯಸನಿ ಪರಮಜಂಗಮ !
ಇಂತಲ್ಲದೆ–ಕಾಯದಿಚ್ಛೆಗೆ ಸುಳಿದು ಕಳವಳಿಸಿ
ತ್ರಿವಿಧಕ್ಕೆ ಬದ್ಧರಪ್ಪವರೆಲ್ಲ ಜಗತ್ಪಾವನರಪ್ಪರೆ ಹೇಳಾ ಗುಹೇಶ್ವರಾ ? ॥೮೮೧॥

೧೫೭೬

ಸಹಜದಿಂದ ನಿರಾಲಂಬವಾಯಿತ್ತು, ನಿರಾಲಂಬದಿಂದ ನಿರಾಳವಾಯಿತ್ತು.
ನಿರಾಳದಿಂದ ನಿರವಯವಾಯಿತ್ತು, ನಿರವಯದಿಂದ ಅನಾದಿಯಾಗಿತ್ತು.
ಅನಾದಿಯಲ್ಲಿ ಮೂರ್ತಿಯಾದನೊಬ್ಬ ಶರಣ.
ಆ ಶರಣನ ಮೂರ್ತಿಯಿಂದ ಸದಾಶಿವನಾದ,
ಆ ಸದಾಶಿವನ ಮೂರ್ತಿಯಿಂದ ಶಿವನಾದ,
ಆ ಶಿವನ ಮೂರ್ತಿಯಿಂದ ರುದ್ರನಾದ. ಆ ರುದ್ರನ ಮೂರ್ತಿಯಿಂದ ವಿಷ್ಣುವಾದ.
ಆ ವಿಷ್ಣುವಿನ ಮೂರ್ತಿಯಿಂದ ಬ್ರಹ್ಮನಾದ.
ಆ ಬ್ರಹ್ಮನ ಮೂರ್ತಿಯಿಂದಾದವು ಸಕಲ ಜಗತ್ತುಗಳೆಲ್ಲಾ –
ಇವರೆಲ್ಲ ನಮ್ಮ ಗುಹೇಶ್ವರನ ಕರಸ್ಥಲದ ಹಂಗಿನಲ್ಲಿ ಹುಟ್ಟಿ ಬೆಳೆದರು. ॥೮೮೨॥

೧೫೭೭

ಸಹಜವ ನುಡಿದಡೆ ಸೇರುವರಿಲ್ಲ ಕಾಣಿರಣ್ಣಾ.
ಅಸಹಜಕ್ಕಲ್ಲದೆ ಲೋಕ ಭಜಿಸದು.
ಕೆರೆಯ ಕಟ್ಟಿಸುವನ (ಕಟ್ಟುವನ?) ಕಂಡು ಒಡ್ಡರಾಮಯ್ಯನೆಂದಡೆ
ಮುಳಿಸಿನಿಂದ ಲಿಂಗತನುವ ನೋಯಿಸುವರೆ ?
ನಮ್ಮ ಗುಹೇಶ್ವರಲಿಂಗವು ಜಗದೊಳಗೆ ಪರಿಪೂರ್ಣವಾದ ಕಾರಣ,
ಶರಣರ ನೋವು ಮರಳಿ, ಪಾತಕರ ತಾಗಿದಡೆ,
ಅಲ್ಲಯ್ಯ ನೋಡಿ ನಗುತಿರ್ದನು. ॥೮೮೩॥

೧೫೭೮

ಸಹಭಾಜನ ಸಹಭೋಜನವೆಂದೆಂಬರು.
ಭಾಜನವಾವುದು ಭೋಜನವಾವುದು ಎಂದರಿಯರು.
ಭಾಜನವೆ ಅಂಗ, ಭೋಜನವೆ ಲಿಂಗ !
ಭಾಜನಸಹಿತ ಭೋಜನಮಾಡುವ ಹಿರಿಯರು,
ಭಾಜನವನಿರಿಸಿ ಹೋದಡೆ ಅದೆ ಭಂಗ – ಗುಹೇಶ್ವರಾ. ||೮೮೪||

೧೫೭೯

ಸಾಗರದೊಳಗಿಪ್ಪ ಪ್ರಾಣಿಗಳು,
ಬೇರೆ ಮತ್ತೊಂದೆಡೆಯಲ್ಲಿ ಇರಬಲ್ಲವೆ ?
ಭವಸಾಗರದೊಳಗಿಪ್ಪ ಜೀವಿಗಳಿಗೆ ಅದೇ ಗತಿಯಲ್ಲದೆ
ಬೇರೆ ಮತ್ತೊಂದೆಡೆಯುಂಟೆ ?
ಗುಹೇಶ್ವರನ ಲೀಲೆ ಜಗನ್ಮಯವಾದಡೆ
ನಾನು ಬೆರಗಾದೆನು ! || ೮೮೫||

೧೫೮೦

ಸಾವ ಜೀವಕ್ಕೆ ಗುರು ಬೇಡ, ಸಾಯದ ಜೀವಕ್ಕೆ ಗುರು ಬೇಡ.
ಗುರುವಿಲ್ಲದೆ ಕೂಡಲು ಬಾರದು.
ಇನ್ನಾವ ಠಾವಿಂಗೆ ಗುರು ಬೇಕು ?
ಸಾವು ಜೀವ ಸಂಬಂಧದ ಠಾವ ತೋರಬಲ್ಲಡೆ
ಆತನೆ ಗುರು – ಗುಹೇಶ್ವರಾ. ||೮೮೬||

೧೫೮೧

ಸಾವನ್ನಕ್ಕರ ಶ್ರವವ ಮಾಡಿದಡೆ, ಇನ್ನು ಕಾದುವ ದಿನವಾವುದು ?
ಬಾಳುವನ್ನಕ್ಕರ ಭಜಿಸುತ್ತಿದ್ದಡೆ, ತಾನಹ ದಿನವಾವುದು ?
ಅರ್ಥವುಳ್ಳನ್ನಕ್ಕರ ಅರಿವುತ್ತಿದ್ದಡೆ, ನಿಜವನೆಯ್ದುವ ದಿನವಾವುದು ?
ಕಾರ್ಯಕ್ಕೆ ಬಂದು, ಆ ಕಾರ್ಯ ಕೈಸಾರಿದ ಬಳಿಕ
ಇನ್ನು ಮರ್ತ್ಯಲೋಕದ ಹಂಗೇಕೆ ?
ತನಿರಸ ತುಂಬಿದ ಅಮೃತಫಲ ಒಮ್ಮಿಗೆ ತೊಟ್ಟುಬಿಡುವುದು ನೋಡಿರೆ.
ದೃಷ್ಟಾಂತವ !
ಬಸವಣ್ಣ ಚೆನ್ನಬಸವಣ್ಣ ಮೊದಲಾದ ಪ್ರಮಥರು
ಗುಹೇಶ್ವರಲಿಂಗದಲ್ಲಿ ನಿಜವನೈದಿ ನಿಶ್ಚಿಂತರಾಗಿರಯ್ಯಾ ! ||೮೮೭||

೧೫೮೨

ಸಾವಿರದ ಕಮಲದಲ್ಲಿ ತಾನಿಪ್ಪನು,
ಕೆಂದಾವರೆಯ ಪುಷ್ಪದ ನೇಮವೆಂತೊ ?
ಪುಷ್ಪ ಮುಟ್ಟಿ ಕೊಯ್ವ ನೇಮವೆಂತೊ ?
ಮುಟ್ಟಿದ ಪರಿಮಳವ ಮುಟ್ಟದೆ ಕೊಯ್ದ
ಗುಹೇಶ್ವರಾ–ನಿಮ್ಮ ಶರಣ. ॥೮೮॥

೧೫೮೩

ಸಿಡಿಲೊಡನೆ ಕಾದುವಂಗೆ ಕೊಡೆಯೊಂದು ಮರೆಯೆ ?
ಪರ್ವತವ ಹೊರುವಂಗೆ ಸಿಂಬಿಯೊಂದು ಸಹಾಯವೆ ?
ಸಕ್ಕರೆಯ ಸವಿವುದಕ್ಕೆ ಬೇರೊಂದು ಪದಾರ್ಥವೆ ?
ಗುಹೇಶ್ವರನ ಅರಿವುದಕ್ಕೆ ಕುರುಹು ಮುನ್ನೇಕೆ ? ॥೮೯॥

೧೫೮೪

ಸಿದ್ಧರಾಮಯ್ಯನನುವ ನಿರ್ಬುದ್ಧಿ ಮನುಜರು ಎತ್ತಬಲ್ಲರೊ,
ಸದ್ಯೋಜಾತವದನನೆ ಬಲ್ಲ.
ಪಂಚಭೂತವ ಮಾಡಿದ ಘನಕ್ಕೆ ಘನವ ತೋರಿದ
ಫಣಿಯ ಮಣಿಯ ತೊಡಗಿದ
ಚತುರ್ದಶಭುವನದ ಹವಣನಾರು ಬಲ್ಲರೊ ?
ಒಳಗು ಹೊರಗುವ ತೋರಲಿಲ್ಲ !
ಮನದ ಕೊನೆಯಲ್ಲಿ ಬೆಳಗುತಿಪ್ಪ ಗುಹೇಶ್ವರಲಿಂಗದಲ್ಲಿ
ಸಿದ್ಧರಾಮಯ್ಯದೇವರು ತಾನೆ ! ॥೯೦॥

೧೫೮೫

ಸಿರಿಯಾಳ–ಚಂಗಳೆಯರಂತೆ ಶಿಶುವಧೆಯ ಮಾಡಿದವನಲ್ಲ.
ನಂಬಿ–ಬಲ್ಲಾಳರಂತೆ ಕಾಮುಕತನವ ಮಾಡಿದವನಲ್ಲ,
ಬೊಮ್ಮಯ್ಯ ಕಣ್ಣಪ್ಪನವರಂತೆ ಜೀವಹಿಂಸೆಯ ಮಾಡಿದವನಲ್ಲ.
ಗುಹೇಶ್ವರಾ ನಿಮ್ಮ ಶರಣರಿಗಿಕ್ಕಿದ ತೊಡವು ಸಂಗನಬಸವಣ್ಣ ! ॥೯೧॥

೧೫೮೬

ಸೀಮೆಯಿಲ್ಲದ ನಿಸ್ಸೀಮೆಯಲ್ಲಿ ಅಡಿಯಿಡುವ ಪರಿ ಎಂತಯ್ಯಾ ?
ಕ್ರೀ ಇಲ್ಲದ ನಿಃಕ್ರೀಯಲ್ಲಿ ನಿಜವ ಒಡಗೂಡು ಪರಿ ಇನ್ನೆಂತೊ ?

ಮೊದಲಿಲ್ಲದೆ ಲಾಭ ಉಂಟೆ ? ಇದುಕಾರಣ–
ತನ್ನ ಹರಿವ ಮನವ ನಿಲ್ಲೆಂದು ನಿಲಿಸಿ,
ಜಿಹ್ವೆ ಗುಹ್ಯಾಲಂಪಟವ ಕೆಡಿಸಿ,
ಕ್ರಿಯಾ ಜ್ಞಾನ ಸಂಬಂಧವಾದಲ್ಲದೆ ಶರಣರು ಮೆಚ್ಚರು.
ಇಂತಿವನರಿಯದೆ;
ಆಸೆ ಎಂಬ ಹೇಸಿಕೆಯ ಮೇಲೆ ವೇಷವೆಂಬ ಹೆಣನ ಹೊತ್ತು
ಹೇಸದೆ ಸತ್ತರಲ್ಲಾ ಹಿರಿಯರು – ಗುಹೇಶ್ವರಾ. ||೮೯೨||

೧೫೮೭

ಸುಖವನರಿಯದ ಹೆಣ್ಣು ಸೂಳೆಯಾದಳು,
ಲಿಂಗವನರಿಯದ ಭಕ್ತ ಶೀಲವಂತ ಪ್ರಪಂಚಿಯಾದ.
ಈ ಸೂಳೆಗೆ ಸುಖವುಂಟೆ ? ಈ ಶೀಲಕ್ಕೆ ಗತಿಯುಂಟೆ ?
ಈ ಉಭಯರುಗಳು ಕೆಟ್ಟ ಕೇಡ ನೋಡಾ ಗುಹೇಶ್ವರಾ. ||೮೯೩||

೧೫೮೮

ಸುತ್ತಲಿಲ್ಲದ ವ್ಯಾಧ ಸುಳಿಯಲಿಲ್ಲದ ಮೃಗವು.
ಒತ್ತಿದನು ಆ ಮೃಗವ ಇರುಬಿನಲ್ಲಿಗೆ ಅಯ್ಯಾ.
'ಸೋವೋವ' 'ಸೋವೋವ' ಎಂದೆನುತ್ತ ಒತ್ತಿದ ಮೃಗವು
ಇರುಬುಗೊಂಡಿತ್ತು.
ಇರುಬಿನ ಕುಳಿಯೊಳಗೆ ಕೊಲ್ಲದೆ ಕೊಂದನಲ್ಲಾ ಮೃಗವನು.
ಅಳಿಯದೆ ಅಳಿದುದಲ್ಲಾ !
ಮಾಡಲಿಲ್ಲದ ಸಯದಾನ, ನೀಡಲಿಲ್ಲದ ಬೋನ
ಅರ್ಪಿತವಿಲ್ಲದ ತೃಪ್ತಿ; ಗುಹೇಶ್ವರಲಿಂಗಕ್ಕೆ. ||೮೯೪||

೧೫೮೯

ಸುರಿವ ಜಲಕ್ಕೆ ನೆಲೆ(ನೆಲ?), ಹೊಲೆಯೆಂದು ಪ್ರಮಾಣಿಸಬಹುದೆ ?
ಉರಿವ ಅನಲಂಗೆ ಶತಡೊಂಕು ಸಸಿನವೆಂಬುದುಂಟೆ ?
ಗುಹೇಶ್ವರಲಿಂಗಕ್ಕೆ ಲೇಸು ಕಷ್ಟವೆಂಬುದಿಲ್ಲ ಸಂಗನಬಸವಣ್ಣಾ. ||೮೯೫||

೧೫೯೦

ಸುಳಿದು ಸುತ್ತುವ ವಾಯುವಿಕಾರದ ಸಂಸಾರದ ಸುಳುಹು.
ಕಾಯವಿಕಾರದ ಕತ್ತಲೆ. ಮನೋವಿಕಾರದ ಮಾಯೆ,

ಕಾಮವಿಕಾರದ ಕಾಳರಕ್ಕಸಿ, ಇಂದ್ರಿಯವಿಕಾರವೆಂಬ ಹುಚ್ಚು ಶುನಿಗಳು,
ಭಾವವಿಕಾರವೆಂಬ ಭ್ರಮೆ– ಮೊದಲಾದ
ಷಡ್ವಿಕಾರಂಗಳಿಗಾಸ್ಪದವಾದ
ವಾಯುವಿಕಾರದ ವ್ಯವಹರಣೆಯುಳ್ಳನ್ನಕ್ಕ,
ಅರಿಯೆನರಿಯೆ ನೆರೆ ಶಿವಪದವ.
ಗುಹೇಶ್ವರಲಿಂಗದ ನಿಜವನರಿದ ಬಳಿಕ,
ಅರಿಯೆನರಿಯೆ ಲೋಕದ ಬಳಕೆಯ. ॥೯೯೬॥

೧೫೯೧

ಸೂಳೆ ಹಲಬರನು ಉಳಿದಳೆಂದು ನಿಂದಿಸಲಿಲ್ಲ ಕೇಳಾ.
ಪತಿವ್ರತೆ ತನ್ನ ಪುರುಷನಲ್ಲದೆ ಮತ್ತೊಬ್ಬನ ಮುಖವ ನೋಡಿದಡೆ
ಅವಳ ಚಾಂಡಾಲಗಿತ್ತಿ ಎಂಬುದು ಲೋಕವೆಲ್ಲವು.
ಕೀರ್ತಿವಾರ್ತೆಗೆ ಮಾಡುವ ಭಕ್ತ ತಪ್ಪಿದಡೆ ಅದ ಮನಕ್ಕೆ ತರಲಿಲ್ಲ.
ಸಜ್ಜನ ಸದ್ಭಕ್ತನೆಡಹಿದಡೆ ಅದ ಸೈರಿಸಬಾರದು ಕೇಳಾ.
ನಮ್ಮ ಗುಹೇಶ್ವರಲಿಂಗಕ್ಕೆ ಆದಿಯಿಂದತ್ತತ್ತ ನೀನೆ ಭಕ್ತನಾದ ಕಾರಣ
ಮನ ನೊಂದಿತ್ತು ಕಾಣಾ ಸಂಗನಬಸವಣ್ಣಾ. ॥೯೯೭॥

೧೫೯೨

ಸೃಷ್ಟಿಗೆ ಹುಟ್ಟಿದ ಕಲ್ಲು, ಕಲ್ಲುಕುಟಿಕನಿಂದ ಮೂರ್ತಿಯಾಗಿ
ಮಂತ್ರಕ್ಕೆ ಲಿಂಗವಾಯಿತಲ್ಲಾ
ಇವರಿಗೆ ಹುಟ್ಟಿದ ಕೂಸ ಲಿಂಗವೆಂದು ಕೈವಿಡಿವ
ವ್ರತಗೇಡಿಗಳನೇನೆಂಬೆ ಗುಹೇಶ್ವರಾ ! ॥೯೯೮॥

೧೫೯೩

ಸೃಷ್ಟಿ ಮೊದಲವಸಾನ ಕಡೆಯಾಗಿ ಅರಿವರಿವೆ ಜ್ಞಾನ.
ಅಂತಪ್ಪ ಜ್ಞಾನವೆ ಚಿದ್ಬ್ರಹ್ಮ, ಆ ಚಿದ್ಬ್ರಹ್ಮ ಚಿದ್ಘನಲಿಂಗ ನೋಡಾ.
ಅದೆಂತೆಂದಡೆ:
"ಸೃಷ್ಟ್ಯಾದ್ಯೈಕ್ಯಾಂತವಿಜ್ಞಾನೇ ಜ್ಞಾನಂಚಾತ್ಮಪ್ರಕಾಶಕಂ !
ತತ್‌ಜ್ಞಾನಂ ಪರಮಂ ಬ್ರಹ್ಮ ಲಿಂಗಮಿತ್ಯೇವ ಭಾವಯೇತ್ ॥"
ಎಂದುದಾಗಿ, ನಿಮ್ಮನರಿದು ತನ್ನ ಮರೆದ
ಪರಮ ಶಿವಯೋಗಿಗೆ ಪರಿಭವಂಗಳುಂಟೆ ಗುಹೇಶ್ವರಾ ? ॥೯೯೯॥

೧೫೯೪

ಸೃಷ್ಟಿಯ ಮೇಲಣ ಕಣೆಯ ತಂದು, ಅಷ್ಟತನುವಿನ ಕೈಯಲ್ಲಿ ಕೊಟ್ಟು,
ಕಟ್ಟಿ ಪೂಜೆಯ ಮಾಡಬೇಕೆಂಬರಯ್ಯಾ.
ಅದೆಂತೆಂದಡೆ: ಭೂಮಿಗೆ ಹುಟ್ಟಿ ಶಿಲೆಯಾದ, ಕಲ್ಲುಕುಟಿಕನ ಕೈಯಲ್ಲಿ ರೂಪಾದ,
ಗುರುವಿನ ಕೈಯಲ್ಲಿ ಮೂರ್ತಿಯಾದ.
ಇಂತೀ ಮೂವರಿಗೆ ಹುಟ್ಟಿದ ಸೂಳೆಯ ಮಗನ
ನಾನೇನೆಂದು ಪೂಜೆಯ ಮಾಡಲಿ ?
ಅದು ಬಿದ್ದಿತ್ತೆಂದು ಸಮಾಧಿಯ ಹೊಕ್ಕಿಹೆನೆಂಬವನು,
ಅಸ್ತ್ರ ಸಮಾಧಿ ಜಲಾಂತರ ವನಾಂತರ ದಿಗಂತರದಲ್ಲಿ ಸತ್ತಡೆ
ಕುಂಭಿನಿಪಾತಕ ನಾಯಕನರಕ.
ಕೈಯ ಲಿಂಗ ಹೋದಡೆ ಮನದ ಲಿಂಗ ಹೋದುದೆ ? – ಎಂದು
ಎತ್ತಿಕೊಂಡು, ಅಷ್ಟವಿಧಾರ್ಚನೆ ಷೋಡಶೋಪಚಾರ ಮಾಡುವುದೆ ವ್ರತವು.
ಇದ ಕಟ್ಟುವ ಭೇದವ, ಮುಟ್ಟುವ ಪಥವ
ಚೆನ್ನಬಸವಣ್ಣನೊಬ್ಬನೆ ಬಲ್ಲನಲ್ಲದೆ
ಮಿಕ್ಕ ಅಭ್ಯಾಸಕ್ಕೆ ಅಗ್ಘವಣಿಯ ಕೊಟ್ಟು ಪರವನೆಯ್ದಿದೆನೆಂಬ
ಲಜ್ಜಗೇಡಿಗಳನೇನೆಂಬೆ ಗುಹೇಶ್ವರಾ. ॥೯೦೦॥

೧೫೯೫

ಸೆರಗ ಹಿಡಿದನು ಸೀರೆಯ ಹರಿದನು.
ಹುಟ್ಟ ಮುರಿದನು ಕಂದಲನೊಡೆದನು.
ಭಂಡನವ್ವಾ ಲಜ್ಜೆಭಂಡನವ್ವಾ
ಕಂಡಡೆ ನುಡಿಸದಿರು ಎಲೆ ಮಾಯಾದೇವಿ.
ಆಯುಷ್ಯ ಹಿರಿದು ಭವಿಷ್ಯ ಕಿರಿದು,
ಭವಗೆಟ್ಟು ಹೋದ ಗುಹೇಶ್ವರ ಅಲ್ಲಯ್ಯಂಗೆ
ಮೂಗಿಲ್ಲ ತಂಗಿ. ॥೯೦೧॥

೧೫೯೬

ಸ್ಫಟಿಕದ ಘಟದಂತೆ ಒಳಹೊರಗಿಲ್ಲ ನೋಡಾ !
ವಿಗಡಚರಿತ್ರಕ್ಕೆ ಬೆರಗಾದೆನು.
ನೋಡುವಡೆ ಕಾಣಬರುತ್ತಿದೆ, ಮುಟ್ಟುವಡೆ ಕೈಗೆ ಸಿಲುಕದು
ಹೊದ್ದುವಡೆ ಸಮೀಪ, ಸಾರಿದಡೆ ಅತ್ತತ್ತ ತೋರುತ್ತಿದೆ.

ಆಕಾರ ನಿರಾಕಾರವ ನುಂಗಿ
ಬಯಲ ಸಮಾಧಿಯಲ್ಲಿ ಸಿಲುಕಿತ್ತು ನೋಡಾ !
ದರ್ಶನದಿಂದ ಅಮೃತಾಹಾರವಾಯಿತ್ತು,
ಬೆರಸಿದಡೆ ಇನ್ನೆಂತೊ ಗುಹೇಶ್ವರಾ ! ॥೯೦೨॥

೧೫೯೭

ಸ್ವತಂತ್ರ ಪರತಂತ್ರಕ್ಕೆ ಆವುದು ಚಿಹ್ನ ನೋಡಾ.
ತಾನೆಂಬುದ ಅಳಿದು ಇದಿರೆಂಬುದ ಮರೆದು,
ಭಾವದಗ್ಧವಾಗಿರಬಲ್ಲಡೆ ಅದು ಸ್ವತಂತ್ರ.
ನೀನೆಂಬುದ ಧಿಕ್ಕರಿಸಿ ತಾನೆಂಬುದ ನೀಕರಿಸಿ
ಉಭಯ ಭಾವದಲ್ಲಿ ಸನ್ನಹಿತವಾಗಿರಬಲ್ಲಡೆ ಪರತಂತ್ರ.
ಸ್ವತಂತ್ರ ಪರತಂತ್ರವೆಂಬೆರಡನೂ ವಿವರಿಸದೆ,
ತನ್ನ ಮರೆದಿಪ್ಪಾತನೆ ಉಪಮಾತೀತನು.
ಗುಹೇಶ್ವರನ ಶರಣರು ದೇಹವಿಲ್ಲದ ನಿರ್ದೇಹಿಗಳೆಂಬುದು
ಇಂದೆನಗೆ ಕಾಣಬಂದಿತ್ತು ನೋಡಾ ಸಿದ್ಧರಾಮಯ್ಯಾ. ॥೯೦೩॥

೧೫೯೮

ಸ್ವಸ್ಥ ಪದ್ಮಾಸನದಲ್ಲಿ ಕುಳ್ಳಿರ್ದು ಅತ್ತಿತ್ತ ಚಲಿಸದೋಸರಿಸದೆ
ನೆಟ್ಟೆಲುವು ನೆಟ್ಟನೆ ಮಾಡಿ,
'ಅಧೋಗಮನ' ವಾಯುವನೂರ್ಧ್ವಮುಖವಂ ಮಾಡಿ
ಮನ ಶಕ್ತಿ ಸಂಧಾನಗೊಳಿಸಿ,
ಚತುಃಪದ ಮಧ್ಯಪೀಠದೊಳಿಪ್ಪ ಜ್ಯೋತಿರ್ಮಯಲಿಂಗವಂ,
ಕಾಣುತ್ತಿರಲಾ ಬೆಳಗು ಮೂರು ಲೋಕವನ್ನಾವರಿಸಿ
ಕತ್ತಲೆ ಹರಿದು ಬೆಳಗುಳಿದು,
ಉದಯಾಸ್ತಮಾನವೆಂಬೆರಡರಿಯದಿರ್ದೆ ಗುಹೇಶ್ವರಾ. ॥೯೦೪॥

೧೫೯೯

ಸ್ವಸ್ಥ ಪದ್ಮಾಸನದಲ್ಲಿ ಕುಳ್ಳಿರ್ದು ನಿಟ್ಟೆಲುವ ಮುರಿದು
ನಿಷ್ಠೆಯಿಂದ ಹಿಂದಣ ಬಟ್ಟೆಯ ತೆಗೆದು,
ಅಮೃತವ ಉಂಡಿಹೆನೆಂಬವರು ಕೆಟ್ಟ ಕೇಡಿಂಗೆ ಕಡೆಯಿಲ್ಲ.
'ಅತ್ಯತಿಷ್ಠದ್ದಶಾಂಗುಲ' ಎಂಬ ಶ್ರುತಿಯ ನೋಡಲು
ಮುಟ್ಟ ನೆಲೆಗೊಳಿಸುವ ಠಾವುಂಟೆ ?
ಸ್ಥಾನಮಾನವೆಂಬ ಮಾತಿಂಗೆ ದೂರವಾದ ಘನವ

ಬ್ರಹ್ಮರಂಧ್ರದಲ್ಲಿ ಕಂಡಿಹೆನೆಂದಡೆ ಕಾಣಬಹುದೆ ?
ನಮ್ಮ ಗುಹೇಶ್ವರಲಿಂಗವು
ಕಲ್ಪಿತಕ್ಕೆ ದೂರ ಕೇಳಾ ಸಿದ್ಧರಾಮಯ್ಯಾ. ॥೯೦೫॥

೧೬೦೦

ಸ್ವಾನುಭಾವದ ಬೆಳಗಿನಲ್ಲಿ ಒಂದು ಬೆಕ್ಕು ಹುಟ್ಟಿತ್ತು.
ಆ ಬೆಕ್ಕಿನ ತಲೆಯ ಮೇಲೊಂದು ಗಿರಿ ಹುಟ್ಟಿತ್ತು.
ಗಿರಿಯ ಮೇಲೆರಡು ರತ್ನ ಹುಟ್ಟಿದವು.
ಆ ರತ್ನಂಗಳನರಸಿಕೊಂಡು ಬರಲು, ಅವು ತನ್ನನವಗ್ರಹಿಸಿದವು.
ಒಂದು ರತ್ನ ಅಂಗವನವಗ್ರಹಿಸಿತ್ತು,
ಮತ್ತೊಂದು ರತ್ನ ಪ್ರಾಣವನವಗ್ರಹಿಸಿತ್ತು.
ಆ ರತ್ನಂಗಳ ಪ್ರಭೆ ತಾನಾದ ನಮ್ಮ ಗುಹೇಶ್ವರನ ಶರಣ
ಸಿದ್ಧರಾಮಯ್ಯದೇವರ ನಿಲವಿಂಗೆ
ನಮೋ ನಮೋ ಎನುತಿರ್ದೆನಯ್ಯಾ ಚೆನ್ನಬಸವಣ್ಣಾ. ॥೯೦೬॥

೧೬೦೧

ಸ್ಥಿರಾಸನದಲ್ಲಿರ್ದು ಸ್ವರವು ನಾಲ್ಕರ ನೆಲೆಯರಿದು
ಉರವಣಿಸುವ ಪವನಂಗಳ ತರಹರಿಸಿ
ಇಂದ್ರಿಯಗಳನೊಂದು ಮುಖವಂ ಮಾಡಿ ಬಂಧಿಸಿ
ಹಾರುವ ಹಂಸೆಯ ಬೋಧಿಸಿ ನಿಲಿಸಿ
ಪರಮಾಮೃತದ ಕುಟುಕನಿಕ್ಕಿ ಸಲಹುತ್ತಿರ್ದೆನಯ್ಯ ಅನುದಿನದಲ್ಲಿ.
ದಾಸೋಹವಳಿದು ಸೋಹವಾಗಲು,
ಹಂಸೆಯ ಗತಿಗೆಟ್ಟು ಪರಮಹಂಸವಾಗಿ ಸೋಹಂ ಸೋಹಂ ಸೋಹಂ ಎಂದುದು
ಗುಹೇಶ್ವರಾ. ॥೯೦೭॥

೧೬೦೨

ಸ್ತುತಿ ನಿಂದೆಗೆ ಕಿವುಡನಾಗಿರಬೇಕು.
ಪರಧನ ಪರಸತಿಯರಿಗೆ ಅಂಧಕನಾಗಿರಬೇಕು.
ವಾಕಿನಿಂ ಪರಬ್ರಹ್ಮವ ನುಡಿವ ಕುತರ್ಕಿಗಳ ಎಡೆಯಲ್ಲಿ
ಮಾಗಿಯ ಕೋಗಿಲೆಯಂತೆ ಮೂಗನಾಗಿರಬೇಕು.
'ಒಂದು' ಎಂದು ಅರಿದಲ್ಲಿ ಸಂದೇಹವಿಲ್ಲದಿರಬೇಕು
ಗುಹೇಶ್ವರಲಿಂಗದಲ್ಲಿ ತನ್ನ ತಾ ಮರೆದಿರಬೇಕು. ॥೯೦೮॥

೧೬೦೩

ಹಗಲಿರುಳೆನ್ನದೆ ಹಸಿವ ಕಳೆದು,
ನಿಜದಲ್ಲಿ ಒರಗಿ ನಿದ್ರೆಯ ಕಳೆದು,
ನೋಡಿ ನೋಡಿ ಸುಖಂಬಡೆದೆನಯ್ಯಾ.
ಗೋಹೇಶ್ವರಯ್ಯಾ ನಿಮ್ಮ ವಿರಹದಲ್ಲಿ, ಕಂಗಳೆ ಕರುವಾಗಿದ್ದೆನಯ್ಯಾ. ॥೯೦೯॥

೧೬೦೪

ಹಗಲು ನಾಲ್ಕು ಜಾವ ಅಶನಕ್ಕೆ ಕುದಿವರು.
ಇರುಳು ನಾಲ್ಕು ಜಾವ ವ್ಯಸನಕ್ಕೆ ಕುದಿವರು.
ಕಂಡವರ ಕಂಡು ಮಂಡೆಯ ಬೋಳಿಸಿಕೊಂಬುವರು.
ಉಂಬುವರ ಕಂಡು ಉಂಬುವರು.
ಪುಣ್ಯಕ್ಷೇತ್ರ ಪುರುಷಕ್ಷೇತ್ರ,
ಅಷ್ಟವಿಧಾರ್ಚನೆ ಷೋಡಶೋಪಚಾರವೆಂಬುದಲ್ಲದೆ
ತಮ್ಮ ನಿಧಾನವ ಸಾಧಿಸುವ ಭೇದವನರಿಯದೆ
ಷಡುಸ್ಥಲಜ್ಞಾನಿಗಳೆಲ್ಲಾ ಸತ್ತರಲ್ಲಾ ಗುಹೇಶ್ವರಾ. ॥೯೧೦॥

೧೬೦೫

ಹಠಯೋಗ ಲಂಬಿಕೆಯೆಂದು ಆಕುಂಚನವೆಂದು
ವಜ್ರ ಅಮರಿಯ ಕಲ್ಪವೆಂದು ಮಲಮೂತ್ರಂಗಳ ಸೇವಿಸುತ್ತ
ಇದು ಪೂರ್ವ ನವನಾಥಸಿದ್ಧರ ಮತೋಕ್ತವೆಂದು
ಕಾಪಾಲಿಕಾಚರಣೆಯ ಆಚರಿಸುವವರಲ್ಲ ಶರಣರು.
ಮೇಣು,
ತಲೆಯೊಳಗಣ ವಾತ ಪಿತ್ಥ ಶ್ಲೇಷ್ಮವ ತೆಗೆದು
ಅಮೃತವೆಂದು ಬಿನುಗು ದೃಷ್ಟವ ತೋರುವರಲ್ಲ ಶರಣರು.
ದ್ರವಿಸುವ ದೇಹದಲ್ಲಿ ಅಪ್ಪುವಿನ ಫಲರಸಕ್ಷೀರ ಘೃತ ಮೊದಲಾದವ ಸೇವಿಸುತ್ತ
ಅನ್ನವ ಬಿಟ್ಟೆವೆಂಬ ಭೂತಚೇಷ್ಟಕರಲ್ಲ ಶರಣರು.
ಇಂತಿವೆಲ್ಲವು ಕಾಕು ಸಟೆ ಭ್ರಾಂತೆಂದು ತಿಳಿದು ನಿರ್ಧರ ನಿಜದಿ ನಿಂದರು,
ಗುಹೇಶ್ವರಾ ನಿಮ್ಮ ಶರಣರು ಅಗ್ರಗಣ್ಯರು. ॥೯೧೧॥

೧೬೦೬

ಹರನ ಕರುಣವ ಪಡೆದ ಸಾಮರ್ಥ್ಯವ ಬಲುಹಿಂದ,
ಶಿವಶರಣರೊಡನೆ ಸೆಣಸಿದಡೆ ಲೇಸುಂಟೆ ?

ಅಘಟಿತಘಟಿತರಿಗೆ ಅಘಟಿತರುಂಟು ನೋಡಾ !
ನೊಸಲಲೊಬ್ಬ ಕಣ್ಣ ತೆಗೆದಡೆ,
ಅಂಗಾಲಲೊಬ್ಬ ಕಣ್ಣ ತೆಗೆವನು.
ಗುಹೇಶ್ವರನ ಶರಣರು ಉಪಮಾತೀತರು. ||೯೧೨||

೧೬೦೭

ಹರಹರಾ ನೀವಿಪ್ಪ ಠಾವನರಿಯದೆ,
ಅಷ್ಟವಿಧಾರ್ಚನೆ ಷೋಡಶೋಪಚಾರ ಮಾಡುವರ
ದಿಟ್ಟತನವ ನೋಡಾ !
ಶಿವಶಿವಾ ನಿಮ್ಮ ಶ್ರೀಮುಖವನರಿಯದೆ
ಸಕಲ ಪದಾರ್ಥವ ನಿಮಗರ್ಪಿಸಿ
ಪ್ರಸಾದವ ಕೊಂಡೆವೆಂದೆಂಬವರ ಎದೆಗಲಿತನವ ನೋಡಾ !
ಹಗರಣದ ಹಣ್ಣ ಮೆದ್ದು ಹಸಿವು ಹೋಯಿತ್ತೆಂದಡೆ
ಆರು ಮೆಚ್ಚುವರು ಹೇಳಾ ಗುಹೇಶ್ವರಾ ? ||೯೧೩||

೧೬೦೮

ಹರಿವ ನದಿಗೆ ಮೈಯೆಲ್ಲ ಕಾಲು.
ಉರಿವ ಕಿಚ್ಚಿಗೆ ಮೈಯೆಲ್ಲ ನಾಲಗೆ.
ಬೀಸುವ ಗಾಳಿಗೆ ಮೈಯೆಲ್ಲ ಮುಖ (ಕೈ?)
ಗುಹೇಶ್ವರಾ ನಿಮ್ಮ ಶರಣಂಗೆ,
ಸರ್ವಾಂಗವೆಲ್ಲ ಲಿಂಗ ! ||೯೧೪||

೧೬೦೯

ಹರಿಹರಿ ಎಂದಡೆ ಹರಿದರಯ್ಯಾ ಹನ್ನಿಬ್ಬರು ಪರಿಚಾರಕರು
ಹರಿದು ಬಂದು ಚರಣಕ್ಕೆರಗಿ ಬಿಜಯಂಗೆಯ್ಸಿ ಎಂದೆನೆ
ಬಿಜಯಂಗೆಯ್ಯದಿರಲು, ಕರವಾಳ ಶಿರಕಿಕ್ಕಿ ಸೆಳೆದು ನೋಡಿದರು.
ನಿರವಲಯ ತನು ಖಡ್ಗಕ್ಕೆ ಸಿಲುಕುವುದೆ ?
ಹಿರಿಯರಾರೊ ? ಕಿರಿಯರಾರೊ ? ಭಕ್ತಿಯ ಸಕೀಲವ ಬಲ್ಲವರಾರೊ ?
ಶಿರ ಹೋದ ಬಳಿಕ ಸರವೆಲ್ಲಿಯದೊ ? ಸಬುದವೆಲ್ಲಿಯದೊ ?
ಶಿವಶರಣರ ಅಂತರಂಗವನರಿಯದೆ ಮರುಳಾದನು ನೋಡಾ
ನಮ್ಮ ಗುಹೇಶ್ವರಲಿಂಗದಲ್ಲಿ ಸಂಗನಬಸವಣ್ಣನು ! ||೯೧೫||

೧೬೧೦

ಹಲವು ಮಕ್ಕಳ ತಾಯಂತೆ, ಹೇಸದೆ ಅವರನಾರೈದ ತನುಸಮರ್ಥವು
ನಿಮಗಲ್ಲದೆ ಇನ್ನಾರಿಗೆ ಅಳವಡುವದು ? ಮುನ್ನಾರಿಗೆ ಅಳವಡುವದು ?
ಇನ್ನು ಎನ್ನಳವೆ ನಿಮ್ಮುವನು ತಿಳಿಯಲು ?
ಮುನ್ನಿನ ಸುಕೃತ ಉಂಟಾಗಿ ನಿಮ್ಮ ಪಾದ ದೊರೆಕೊಂಡಿತ್ತು !
ಇನ್ನು ನಮ್ಮನಿಳಿಯ ಬಿಡದೆ, ಎನ್ನುವನು ಇವನೆಂದು ವಿವರಿಸಿ,
ಎನ್ನ ನಿಮ್ಮತ್ತ ತೆಗೆ ಕರುಣಿಸಿ.
ಎನ್ನ ಮಾತಾಪಿತ – ಗುಹೇಶ್ವರಾ,
ನಿಮ್ಮ ಶರಣ ಮಡಿವಳ ಮಾಚಯ್ಯನಿಂದ ಬಯಲಾದೆನು,
ಮುಕ್ತನಾದೆನು ನಿಮ್ಮ ಕರುಣದಿಂದ ! ॥೯೧೬॥

೧೬೧೧

ಹವಣಲ್ಲದ ಶಾಖೆಯ ಕಪಿ ಹಿಡಿಯಲೊಲ್ಲದು.
ಗಮನವಿಲ್ಲದ ಪಿಕಶಿಶು ನುಡಿಯಲರಿಯದು.
ಪ್ರಭಾವಿಸಿದಲ್ಲದೆ ಉಲಿಯದು ಕುಕ್ಕಟ.
ಇಂತೀ ತ್ರಿವಿಧದ ಭೇದವ ನೋಡಿರೆ ಭಕ್ತರಪ್ಪಡೆ !
ಹೂ ಮಿಡಿಯ ಹರಿದಡೆ ಹಣ್ಣಪ್ಪುದೆ ?
ಹಸಿವು ತೃಷೆ ವಿಷಯ ಉಳ್ಳನ್ನಕ್ಕ ಅದ್ವೈತ ಉಂಟೆ ಜಗದೊಳಗೆ ?
ತನ್ನ ಮರೆದು ಲಿಂಗವ ಮರೆವುದು,
ತನ್ನ ಮರೆಯದೆ ಲಿಂಗವ ಮರೆವ ಯೋಗವಿನ್ನೆಂತಾದುದೊ ?
ಸುಡು, ಸುಡು, ಅವಂದಿರು ಗುರುದ್ರೋಹಿಗಳು ಆಚಾರಭ್ರಷ್ಟರು.
ಈ ಉಭಯ ತನುಗುಣ ನಾಸ್ತಿಯಾಗದನ್ನಕ್ಕ; –
ಸತ್ಕ್ರಿಯೆಯಿಂದ ಮಾಡುವುದು ಲಿಂಗದಾಸೋಹವ.
ಭಯಭಕ್ತಿಯಿಂದ ಮಾಡುವುದು ಜಂಗಮದಾಸೋಹವ.
ತನು ಕರಗದೆ ಮನ ಬೆರಸದೆ ನಿಮಗೆ ಮಾಡುವ ವ್ರತಗೇಡಿಗಳ
ಎನಗೆ ತೋರದಿರಾ ಗುಹೇಶ್ವರ. ॥೯೧೭॥

೧೬೧೨

ಹಸಿದ ಕಾಳೋರಗನ ಹೆಡೆಯ ನೆಳಲಲ್ಲಿ ಕಾಳಂಧನೆಂಬ ಕಪ್ಪೆ !
ಅಂತಹ ಕಾಳೋರಗನ ಏಳ ನುಂಗಿತ್ತು.
ಅದರ ಬೇಳುವೆಯಲ್ಲಿ ಮೇಲಾಗಿ ಬದುಕಿದೆ ಚೆನ್ನಬಸವಣ್ಣನಿಂದ !
ಗುಹೇಶ್ವರಲಿಂಗವೆಂಬುದು ಪ್ರಮಾಣವಾಯಿತ್ತು! ॥೯೧೮॥

೧೬೧೩

ಹಸಿವ ಮುಂದಿಟ್ಟುಕೊಂಡು ಸುಳಿವಾತ ಜಂಗಮವಲ್ಲ.
ಹಸಿವ ಮುಂದಿಟ್ಟುಕೊಂಡು ಸುಳಿಯಲದೇಕೊ ?
ಹಸಿವೆಂಬುದೆ ತನುಗುಣಲಕ್ಷಣಕೆ ಚೈತನ್ಯವಾಗಿಹುದು.
ಆ ತನುಗುಣಲಕ್ಷಣ ಹಿಂಗಿದಲ್ಲದೆ ಜಂಗಮವಲ್ಲ.
ಅದಕ್ಕೆ ಏನಾಯಿತ್ತು ? ಹಸಿವ ಮುಂದಿಟ್ಟು ಸುಳಿವುದಕ್ಕೆ ತೆರನುಂಟು.
ಉಂಡರೆ ಹಂಗಿಗನೆ ಶಿವಯೋಗಿ ?
ಅನುವರಿದುಣಬಲ್ಲಡೆ ಎನ್ನವನೆಂಬೆನು.
ಅನುವನರಿಯದೆ ಭಕ್ತನ ಹರುಷವ ಮುರಿದು ಉಂಡರೆ, ಕೊಂಡರೆ
ಬ್ರಹ್ಮನವನಲ್ಲದೆ ಅವ ನಮ್ಮವನಲ್ಲ.
ಅನುವನರಿಯದೆ ಭಕ್ತನ ಭ್ರಮೆಗೊಳಿಸಿ ಉಂಡರೆ, ಕೊಂಡರೆ
ಹರಿಯವನಲ್ಲದೆ ನಮ್ಮವನಲ್ಲ.
ಅನುವನರಿಯದೆ ಭಕ್ತರಿಗೆ ಕೋಪವ ಹುಟ್ಟಿಸಿ ಉಂಡರೆ, ಕೊಂಡರೆ
ರುದ್ರನವನಲ್ಲದೆ ನಮ್ಮವನಲ್ಲ.
ಇಂತೀ ತ್ರಿವಿಧ ತೆರೆನನರಿಯದೆ ಉಂಬವರೆಲ್ಲರು ತ್ರಿವಿಧ ಭಾಜನರು ಕಾಣಾ
ಗುಹೇಶ್ವರಾ ! ॥೯೧೯॥

೧೬೧೪

ಹಸಿವು ತೃಷೆ ವಿಷಯ ವ್ಯಸನ ಈ ನಾಲ್ಕು ಉಳ್ಳವರು
ಗುಹೇಶ್ವರಲಿಂಗದಲ್ಲಿ ಐಕ್ಯರೆಂತಪ್ಪರೊ ?
ಅರಿದರಿದು ಆಚರಿಸಲರಿಯದ ಕಾರಣ ಲಿಂಗೈಕ್ಯರಲ್ಲ.
ಅರಿದನಾದಡೆ ಹಸಿವ ಮೀರಿ ಉಂಬ, ತೃಷೆಯ ಮೀರಿ ಕೊಂಬ,
ವಿಷಯವನಾಳಿಗೊಂಬ, ವ್ಯಸನವ ದಾಂಟಿ ಭೋಗಿಸುವ.
ಇದನರಿಯದಲೆ ಚರಿಸುವ ಕೀಟಕ ಮಾನವರ ಕಂಡು
ಎನ್ನ ಮನ ನಾಚಿತ್ತು ಗುಹೇಶ್ವರಾ. ॥೯೨೦॥

೧೬೧೫

ಹಸಿವುಳ್ಳನ್ನಕ್ಕ ವ್ಯಾಪಾರ ಬಿಡದು,
ಶೀತ ಉಳ್ಳನ್ನಕ್ಕ ಉಪಾಧಿಕೆ ಬಿಡದು,
ಮಾತುಳ್ಳನ್ನಕ್ಕ ಬೂಟಾಟಿಕೆ ಬಿಡದು. ನಿದ್ರೆಯುಳ್ಳನ್ನಕ್ಕ ಸತಿಯ ಸಂಗ ಬಿಡದು.
ಇದು ಕಾರಣ–
ಕ್ಷುತ್ತಿಂಗೆ ಭಿಕ್ಷೆ, ಶೀತಕ್ಕೆ ರಗಟೆ, ಮಾತಿಂಗೆ ಮಂತ್ರ,

ಶಯನಕ್ಕೆ ಶಿವಧ್ಯಾನವೆಂದು ಹೇಳಿಕೊಟ್ಟ
ಗುರುವಚನವ ಮೀರಿ ನಡೆವವರಿಗೆ
ಪರದಲ್ಲಿ ಪರಿಣಾಮ ದೊರೆಕೊಳ್ಳದು ನೋಡಾ.
ಇದು ಕಾರಣ–
ಗುರುವಾಜ್ಞೆಯ ಮೀರಿ ಮನಕ್ಕೆ ಬಂದಂತೆ ನಡೆವವರ
ಎನಗೊಮ್ಮೆ ತೋರದಿರಾ ಗುಹೇಶ್ವರಾ. ॥೯೨೦॥

೧೬೧೬

ಹಾಸುಹೊಕ್ಕಿನ ಠಾವ ದಾಸಯ್ಯ ಬಲ್ಲ.
ಉಂಬ ಉಡುವ (ಊಡುವ ?) ಠಾವ ಸಿರಿಯಾಳ ಬಲ್ಲ.
ಕೊಂಬ ಕೊಡುವ ಠಾವ ಬಲ್ಲಾಳ ಬಲ್ಲ.
ಲಿಂಗ ಜಂಗಮದ ಠಾವ ಬಸವಣ್ಣ ಬಲ್ಲ.
ರುಚಿಯ ಠಾವ ಬಂಕಯ್ಯ ಬಲ್ಲ.
ನಮ್ಮ ಗುಹೇಶ್ವರನ ನಿಲವ,
ಸೊನ್ನಲಿಗೆಯ ಸಿದ್ಧರಾಮಯ್ಯನೆ ಬಲ್ಲ. ॥೯೨೧॥

೧೬೧೭

ಹಾಳುಮನೆಯ ಹೊಸತಿಲಲ್ಲಿ ನಿಂದಿದ್ದು,
ಆರೂ ಬಾರದ ಬಟ್ಟೆಯ ನೋಡುತ್ತ,
ಆರಿಂಗಾಗದಿರವು ನಮಗಾಯಿತ್ತೆನುತಲಿ, ಆರಯ್ಯ ಬಂದವರಿಗೆ ಶಂಕೆಯಿಲ್ಲ !
ಕಾಲಿಲ್ಲದೆ ಬಂದವರು, ಕೈಯಿಲ್ಲದೆ ಕೊಂಬವರು, ಮೇಲು ತಲೆ ಇದ್ದವರು ನುಡಿವಾಗ
ಮಾರಾರಿಯ ಬೆಳಸ, ಆರಯ್ಯ ಸಂತವಿಡುವರೆಂದಡೆ–
ಸಾರಾಯಂಗಲ್ಲದೆ ಮತ್ತಿನ್ನಾರಿಗಹುದು ಹೇಳಾ ?
ಸಂತೆಯ ಗುಡಿಲ ಸೂಳೆಗೆ ಕೊಂತವ ಕೊಟ್ಟಡೆ
ಎಂತು ಬಚ್ಚಿಡಬಹುದು ?
ಮರುಳುತನವು, ಶಂಕಿಸಿತು ಎನ್ನ ಮನವು,
ಹಿಂದು ಮುಂದು ಕೂಡುವರಿಲ್ಲೆಂದು ಉಮ್ಮಳದಲ್ಲಿ.
ಗುಹೇಶ್ವರಾ ನಿಮ್ಮ ಶರಣ ಸಂಗನಬಸವಣ್ಣನ ಪ್ರಸಾದವ ಕೊಂಡು
ನಿರುಪಮಸುಖಿಯಾದೆನು. ॥೯೨೨॥

೧೬೧೮

ಹಿಂದಳದನೊಂದು ಮಾಡಿ ಸಂದು ಸಂಶಯವಿಲ್ಲದೆ
ನಿಂದ ನೆಲವ ತೋರುವ ಬಸವಣ್ಣನ ಪರಿಯ ನೋಡಾ

ಮುಂದಿರ್ದ ಕೂಸಿನ ಸಂದ ಸರ ಒಂದಾಗಿ ಎರಡೊಂದಾದ
ಘನಮಹಿಮ ಬಸವಣ್ಣನನೇನೆನ್ನಲಿ ?
ಮೂರು ಮೂರನೆ ಮಾಡಿ, ಆರು ಆರನೆ ತಂದು,
ಬೇರೆ ಮತ್ತಿಲ್ಲದ ಬಸವಣ್ಣನ ಪರಿಯ ನೋಡಾ!
ಹತ್ತು ಹತ್ತನೆ ಕೂಡಿ ಧಾತು ಧಾತುವ ಬೆರೆಸಿ
ಕಳೆಕಳೆಗಳೊಂದಾದ ಬಸವಣ್ಣನ ಪರಿಯ ನೋಡಾ!
ಕೃತಯುಗ ತ್ರೇತಾಯುಗ ದ್ವಾಪರಯುಗವಿಲ್ಲದಂದು
ಲಿಂಗಸ್ಥಲ ಜಂಗಮಸ್ಥಲ ಪ್ರಸಾದಸ್ಥಲವಿಲ್ಲದಂದು:
ಇಂತೀ ತ್ರಿವಿಧವು ಬಸವಣ್ಣನ ಕೈಯಲ್ಲಿ ನಿಕ್ಷೇಪವಯ್ಯಾ!
ಅಂದು ಲಿಂಗದಲಿ ಅನಿಮಿಷ, ಇಂದು ಜಂಗಮದಲಿ ಅನಿಮಿಷ
ಬಸವಣ್ಣ ಅಂದಾದ ಗುರುವೆಂದರಿದೆನಾಗಿ
ಗುಹೇಶ್ವರಾ ಅವಳೋಕ್ಯ ಸಂಗನಬಸವಿದೇವನ
ಶ್ರೀಪಾದಕ್ಕೆ ಶರಣು ಶರಣು. ||೯೨೪||

೧೬೧೯

ಹಿಂದೆನ್ನ ಗುರು ಅನಿಮಿಷಂಗೆ ಲಿಂಗವ ಕೊಟ್ಟೆನೆಂಬ ಸೂತಕ ಬೇಡ.
ಅಂದು ಅನಿಮಿಷನು ನಿನ್ನ ಕೈಯಲ್ಲಿದ್ದುದ ತೆಕ್ಕೊಂಡನೆಂಬ ಸಂಕಲ್ಪ ಬೇಡ.
ಹಿಂದು ಮುಂದೆಂಬ ಸಂದಳಿದು, ನಿಜದಲ್ಲಿ ಭರಿತನಾದ ಬಳಿಕ,
ಕೊಡಲುಂಟೆ ಕೊಳಲುಂಟೆ ಹೇಳಾ ?
ಹಿಡಿವಡೆ ಸಿಕ್ಕದು, ಕೊಡುವಡೆ ಹೋಗದು,
ಎಡೆಯಾಟದ ವ್ಯವಹಾರಕ್ಕೆ ಬಾರದು ನೋಡಾ.
ರೂಪಿನ ಸಂಚವ ಕೆಡಿಸಿ ನಿರೂಪು ಸಯವಾಯಿತ್ತು ನಿನಗೆ.
ಗುಹೇಶ್ವರನೆಂಬ ಲಿಂಗವ ನಿನಗಿನ್ನು ಹೊಸದಾಗಿ ಕೊಡಲುಂಟೆ
ಹೇಳಾ ಸಂಗನಬಸವಣ್ಣಾ ? ||೯೨೫||

೧೬೨೦

ಹಿರಿದೊಂದು ಮಾರಿಮಸಣಿಯು ಕೈಯಿಲ್ಲದ ಮೋಟ ಹಿಡಿದನು.
ಉಲಿವ ಕಮಲದಲುದಕವಿರ್ದುದು, ಕುಡಿವವರಿಲ್ಲದೆ ಬತ್ತಿ ಹೋಯಿತು.
ನರರು ಸುರರು ಅಧಿದೇವತೆಗಳು, ಕುಲವನರಸುತ ಕೂಗುತ್ತೈದಾರೆ.
ತನ್ನ ಸುಳುಹಿಗೆ ತನ್ನ ನಿಲುವಿಗೆ,
ತಾನೆ ಬೆರಗಾದನು ಗುಹೇಶ್ವರ ! ||೯೨೬ ||

೧೬೨೧

ಹಿರಿಯರನೆಲ್ಲ ಹುಟ್ಟಿಸಿದಾತನನರಿಯಿರೊ,
ಹಿರಿಯರ ಮಕ್ಕಳಿರಾ ?
ಇಂದು ಎಂದೇನೊ ? ನಾಳೆ ಎಂದೇನೊ ?
ಎಂದೂ ಒಂದೇ ಮಕ್ಕಳಿರಾ ?
ಗುಹೇಶ್ವರಲಿಂಗ ಹಂಗಿಲ್ಲದ ಸಂಯೋಗ
ಇದ ಬೇಗನರಿಯಿರೊ ಹಿರಿಯರ ಮಕ್ಕಳಿರಾ. ||೯೨೭ ||

೧೬೨೨

ಹುಟ್ಟು ಬಂಜೆಯ ಮಗನೊಬ್ಬ ಈಯದೆಮ್ಮೆಯ ಗಿಣ್ಣವ ಬೇಡಿದನು.
ಕೊಂಬಿಲ್ಲದ ಮರನನೇರಿ ತುಂಬ ಹಣ್ಣ ಮೆಲಿದನು.
ಗುಹೇಶ್ವರ ಗುಹೇಶ್ವರ ಇಳಿ ಎಂದಡೆ ಅಳತ್ಕೈದಾನೆ ! ||೯೨೮||

೧೬೨೩

ಹುಸಿಯಿಲ್ಲದ ಗೂಡಿನೊಳಗೆ,
ಹೊಸ ಬಣ್ಣದ ಹಕ್ಕಿಯ ಭಸ್ಮವ ಮಾಡಿ ಆ ಗೂಡನೆಯ್ದೆ ನುಂಗೆ,
ಶಿಶು ತಾಯ ಬೆಸಲಾಗಿ, ತಾಯಿ ಶಿಶುವ ನುಂಗೆ,
ಶಿಶು ಕೋಪದಿಂದ ತಾಯನೆಯ್ದೆ ನುಂಗೆ,
ಹೊಸ ದೇಶದಿಂದೊಬ್ಬನಾರಯ್ಯ ಬಂದಾತ
ಹೆಸರಿಲ್ಲದಂತಿಬ್ಬರನೆಯ್ದೆ ನುಂಗೆ
ಬಸವ ಚನ್ನಬಸವ ಅನಿಮಿಷ ಗುಹೇಶ್ವರ ಸಹಿತ
ಶಿಶುವಿನ ಕರಸ್ಥಲದಲ್ಲಿಯೆ ಸುಖಿಯಾದರು ! ||೯೨೯||

೧೬೨೪

ಹೂ ಮಿಡಿಯ ಹರಿದು ಒತ್ತಿ ಹಣ್ಣ ಮಾಡಿಹೆನೆಂದಡೆ ಹಣ್ಣಾಗಬಲ್ಲುದೆ ?
ಪರಿಮಳವಿಲ್ಲದ ನನೆಯನರಳಿಸಿ ಮುಡಿದಹೆನೆಂದಡೆ ಸೌರಭ ಉಂಟೆ ?
ಶಿವಶರಣರ ನಿಲವು ಕಾಂಬ ಕಾಲಕ್ಕೆ ಕಾಣಬಹುದಲ್ಲದೆ
ಎಲ್ಲಾ ಹೊತ್ತು ಕಾಣಬಹುದೆ ? ಅಹ ಕಾಲಕ್ಕೆ ತಾನೆ ಅಪ್ಪುದು.
ಗುಹೇಶ್ವರನ ಶರಣರ ನಿಲವ ಕಂಡ ಬಳಿಕ
ಮರಹು, ಬೆಳಗ ಕಂಡ ಕತ್ತಲೆಯಂತೆ
ನೋಡ ನೋಡ ಹರೆವುದು ನೋಡಾ ಸಂಗನಬಸವಣ್ಣಾ. ||೯೩೦||

೧೬೨೫

ಹೂವ ಹೊಯ್ಯ ಹೋಗಿ ಕರಡಿಗೆಯ ಮರೆದೆ;
ಪೂಜಿಸ ಹೋಗಿ ಲಿಂಗವ ಮರೆದೆ.
ಗಾಡಿಗರೊಡನಾಡಿ ಜೇನನಳಿದು ತುಪ್ಪವ ಮರೆದೆ.
ಅವರೆಲ್ಲರ ಒಡನಾಡಿಯಾಗಿ ಗುಹೇಶ್ವರಲಿಂಗವ ಮರೆದೆ. ||೯೩೧||

೧೬೨೬

ಹೂವ ಕೊಯ್ಯ ಹೋದಡೆ, ಹೂವಿನ ಮೇಲೊಂದು ಗಿಡ ಹುಟ್ಟಿತ್ತು.
ಹೂವಿನ ಸೊಂಪುವನಾರೂ ಕಂಡವರಿಲ್ಲ.
ಹೂವಿನ ಗುಂಪವನಾರೂ ಬಲ್ಲವರಿಲ್ಲ.
ಹೂವ ಕೊಯ್ಯದೆ ಗಿಡವ ಕಡಿಯದೆ
ನೇಮ ಸಂದುದು ಗುಹೇಶ್ವರಾ. ||೯೩೨||

೧೬೨೭

ಹೂವಿನ ಮೇಲೊಂದು ಚಿಕ್ಕ ಬೆಟ್ಟ ಹುಟ್ಟಿ,
ಬೆಕ್ಕಿನ ಮೇಲಾರು ಬೆಟ್ಟ ಹುಟ್ಟಿದವು.
ಬೆಟ್ಟದ ಮೇಲಣವರು ಕಲ್ಲನಿರಿಸಿ ಆರೂ ಕಾಣರು !
ಒಂದು ಗಿರಿ ನೂರನಾಲ್ವತ್ತೆಂಟು ಲಕ್ಷ ಮುಖವು.
ನಾನೊಂದು ಮುಖದಲಿ ಇದ್ದೇನೆ ಕಾಣಾ ಗುಹೇಶ್ವರಾ. ||೯೩೩||

೧೬೨೮

ಹೃದಯದಲ್ಲಿರ್ಪ ಮಹಾಲಿಂಗದ ಬೆಳಗಿನಿಂದ
ನಾಸಿಕೆಯಲ್ಲಿ ಆಚಾರಲಿಂಗವ ಕಂಡೆನಯ್ಯಾ.
ಜಿಹ್ವೆಯಲ್ಲಿ ಗುರುಲಿಂಗವ ಕಂಡೆನಯ್ಯಾ.
ನೇತ್ರದಲ್ಲಿ ಶಿವಲಿಂಗವ ಕಂಡೆನಯ್ಯಾ.
ತ್ವಕ್ಕಿನಲ್ಲಿ ಜಂಗಮಲಿಂಗವ ಕಂಡೆನಯ್ಯಾ.
ಭಾವದಲ್ಲಿ ಮಹಾಲಿಂಗವ ಕಂಡೆನಯ್ಯಾ.
ಇಂತೀ ಷಡ್ವಿಧಲಿಂಗವನು
ಎನ್ನ ಸರ್ವಾಂಗದಲ್ಲಿ ಕಂಡು [ಮಹಾಲಿಂ]ಗವಾದೆನು
ಕಾಣಾ ಗುಹೇಶ್ವರಾ. ||೯೩೪||

೧೬೨೯

ಹೆಣ್ಣ ನಂಬಿ ತನು ಮನ ಧನವನಿತ್ತೆಯಲ್ಲಾ ಎಲೆ ಮನವೆ ?
ಇದ್ದುದನೆಲ್ಲವ ಕೊಂಡು ಬತ್ತಲೆ ಮಾಡಿ ತಲೆಯ ಬೋಳಿಸಿ
ಕೈಯಲ್ಲಿ ಹಂಚ ಕೊಟ್ಟು ಮತ್ತೊಬ್ಬಗಾಸೆ ಮಾಡುತ್ತಿದ್ದಾಳೆ ಕಂಡಾ !
(ನಿನ್ನ?) ಮುಂದೆ ಮನಕೆ ಬಂದ ಪುರುಷನ ನೋಡುವಳು ಕಾಣಾ.
ಮತ್ತವಳ ನಂಬಿ ನಚ್ಚು ನಾಚಿಕೆಯಿಲ್ಲದ ಭಂಡ ಮನವೆ !
ಹೆಣ್ಣಿನ ಪಾಟಿಯ ತೊರೆದು ಕುಡು ಭಕ್ತ್ಯಂಗನೆಗೆ ತನು ಮನವ
ಮುಕ್ತ್ಯಂಗನೆ ನಿನಗೊಲಿವಳು.
ಬೇಗ ವಿರಕ್ತನಾಗಿ, ಹೆಣ್ಣ ಜಾಡಿಸಿ, ತಲೆಯ ಬೋಳಿಸಿಕೊಂಡು,
ಜಾಡಿಗಂಬಳಿಯ ಮುಸುಕಿಟ್ಟು
ಕರ್ಪರ ಒಂದರೊಳು ದೇಶಾಂತರಿಯಾಗು,
ಜಡನ ತೆಗಳಿಸಿ (ಜಡವತಿಗಳಿಸಿ?) ಮುಂದೆ ಲಿಂಗವಹೆ ಕಾಣಾ
ಗುಹೇಶ್ವರಾ. ॥೯೩೫॥

೧೬೩೦

'ಹೆಸರು ಹಾಲಯ್ಯ ಎರೆದುಂಬುದಂಬಿಲ' ಎಂಬ
ಲೋಕದ ಗಾದೆಯ ಮಾತು ದಿಟವಾಯಿತಲ್ಲಾ !
ಮಾತು ಕಲಿತು ಮಂಡೆಯ ಬೋಳಿಸಿಕೊಂಡು
ಊರ ಮಾರಿಯ ಮರನೇರಿದಂತೆ
ಮಾಯೆಯ ಕೊರಳಲ್ಲಿ ಕಟ್ಟಿಕೊಂಡು
ಘಟಸರಣಿಯ ಪಶುಗಳು ಜಂಗಮವೆಂದು ಸುಳಿವ
ನಾಚಿಕೆಯ ನೋಡಾ ಗುಹೇಶ್ವರ. ॥೯೩೬॥

೧೬೩೧

ಹೇಳಿ [ಹೆ] ಹೇಳಿ [ಹೆ] ಕೇಳಿರಣ್ಣಾ
ಮೂರರ ಹೊಲಿಗೆಯ ಬಿಚ್ಚಿ ಆರಮಾಡಬೇಕು.
ಆರರ ತಿರುಳ ತೆಗೆದು ಒದೂರೊಳಗೆ ನಿಲಿಸಬೇಕು.
ಐದರ ಮುಸುಕನುಗಿದು. ಐದರ ಕೆಳೆಯ ಕೆಡಿಸಿ
ಐದರ ನಿಲವನಡಗಿಸಿ.
ಮೂರರ ಮುದ್ರೆಯನೊಡೆದು. ನಾಲ್ಕರೊಳಗೆ ನಿಲ್ಲದೆ
ಮೂರು ಮುಖವು ಒಂದೆ ಭಾವವಾಗಿರಬೇಕು.
ಈ ಭೇದವನರಿಯದೆ ಸುಳಿವವರ ಕಂಡು
ಬೆರಗಾದೆನು ಕಾಣಾ ಗುಹೇಶ್ವರಾ. ॥೯೩೭॥

೧೬೩೨

ಹೊಟ್ಟು ಜಾಲಿಯ ತುತ್ತತುದಿಯ ಮೇಲೊಂದು
ಚೌಷಷ್ಟಿ ವಿದ್ಯಾಕಳಾಪ್ರವೀಣವೆಂಬ ಪಟ್ಟಣ.
ಆ ಪಟ್ಟಣದೊಳಗೊಬ್ಬ ತಳವಾರ–
ಹುಟ್ಟು ಬಂಜೆಯ ಮಗ ಮರೆದೊರಗಲು,
ಐದು ಆನೆಯ ಕಳ್ಳರೊಯ್ದರು, ಐದು ಒಂಟೆ ಹುಯ್ಯಲು ಹೋದವು–
ಅರೆಮರುಳಂಗೆ ನೆರೆಮರುಳ ಬುದ್ಧಿಯ ಹೇಳುತ್ತಿರ್ಪುದ ಕಂಡೆ.
ಕುರುಬ ಕುರಿಯ ಹಾಲ ಕರೆದು ಒಲೆಯ ಮೇಲಿಕ್ಕೆ
ಹಾಲುಕ್ಕಿ ಮಿಕ್ಕ ಹಾಲ ಬೆಕ್ಕು ಕುಡಿಯಿತ್ತು.
ಬೆಣ್ಣೆಯ ಮುಂದಿಟ್ಟುಕೊಂಡಳುತಿರ್ದ ಕಾಣಾ ಗುಹೇಶ್ವರಾ. ॥೯೩೮॥

೧೬೩೩

ಹೊನ್ನಿಗಾಗಿ ಸತ್ತುದೊಂದು ಕೋಟ್ಯನುಕೋಟಿ
ಹೆಣ್ಣಿಗಾಗಿ ಸತ್ತುದೊಂದು ಕೋಟ್ಯನುಕೋಟಿ
ಮಣ್ಣಿಗಾಗಿ ಸತ್ತುದೊಂದು ಕೋಟ್ಯನುಕೋಟಿ
ನೀ ಗುರಿಯಾಗಿ ಸತ್ತವರನಾರನೂ ಕಾಣೆ ಗುಹೇಶ್ವರಾ. ॥೯೩೯॥

೧೬೩೪

ಹೊನ್ನೆಂಬ ಕಾರ್ಮಿಕವ ಜರಿದು ಹರಿದು, ಮಣ್ಣೆಂಬ ಭವದ ಭವದ ಹರಿದು,
ಹೆಣ್ಣೆಂಬ ರಾಕ್ಷಸಿಯ ಅಣಲೊಳಗೆ ಸಿಕ್ಕಿ ಅಗಿದಗಿದು ತಿನಿಸಿಕೊಂಬ
ಜಡಜೀವಿಗಳ ಸಂಗದಿಂದಾದ ಸಕಲ ಸುಖಭೋಗಂಗಳ ಬಿಟ್ಟು;
ಲಿಂಗರತಿ ಪರಮಸುಖದ ಚಿದಮೃತದ ನಿತ್ಯ ತೃಪ್ತಿ ಸಂತೋಷ ಇಂಬುಗೊಂಡು,
ವೇಷದ ಭ್ರಾಂತಿನ ಭ್ರಾಮಕದ ಸಮಯ ಕುಲಪಾಷಂಡಿಗಳ ತತ್ಸಂಗವ ಬಿಟ್ಟು
ನಿರಾಶಾ ಪಥದ ಸುಜ್ಞಾನವೆ ಅನುಕೂಲವಾಗಿ
ಘೃತ ಘಳ ಮಧುರರಸ ಮೃಷ್ಟಾನ್ನಂಗಳಲ್ಲಿ ಮನಮುಗ್ನವಾದ ಪರಮ ಪ್ರಸಾದದಲ್ಲಿ
ಪರಿಣಾಮಿಯಾದ ಪರಮಲಿಂಗೈಕ್ಯ ವಿರಕ್ತಂಗೆ ಲಿಂಗಾರ್ಪಿತವಲ್ಲದೆ–
ಇಂತೀ ಕ್ರಮವನರಿದು ಸಕಲಭ್ರಾಂತನಳಿಯದೆ
ಮನ್ಮಥವೇಷಧಾರಿಗಳು ಪಂಚಲೋಹ ಕಾರ್ಮಿಕವ ಧರಿಸಿಕೊಂಡು
ಲಿಂಗಾರ್ಪಿತ ಭಿಕ್ಷೆಯೆಂದು ಭುಂಜಿಸುವ ಭುಂಜನೆಯೆಲ್ಲವು
ವರಾಹ ಕುಕ್ಕುಟದ ಮೇಧ್ಯವು, ಅವರಿಗೆ ಪ್ರಸಾದವೆಂಬುದು ಸ್ವಪ್ನದಲ್ಲಿಯೂ ....
.......ಕೊಂಬುದೆಲ್ಲವು ಕತ್ತೆಯ ಮಾಂಸ ಕಾಣಾ ಗುಹೇಶ್ವರಾ. ॥೯೪೦॥

೧೬೩೫

ಹೊರಗಾಡಿ ಬಂದೆನೆಂದು ನುಡಿಸಲೊಲ್ಲದೆ ಸುಮ್ಮನಿದ್ದೆನು
ಎನ್ನ ಮನ ನೊಂದು ತಾಗಿದಡೆ ನಿಮ್ಮತ್ತ ಮುಂದಾದೆನು.
ಬಿಕ್ಕುತ್ತ ಬೆದರುತ್ತ ಕಾಲಮೇಲೆ ಬಿದ್ದಡೆ,
ಕಂಗಳ ಉದಕ ಮಜ್ಜನಕ್ಕೆರೆದಂತಾಯಿತ್ತು !
ಅಂತಿರ್ದಡೆ ಕಂಡು ನೆಗಹಿದನು ನಮ್ಮ ಗುಹೇಶ್ವರಲಿಂಗವು. ||೯೪೧ ||

೧೬೩೬

ಹೊರವೇಷದ ವಿಭೂತಿ ರುದ್ರಾಕ್ಷಿಯನು ಧರಿಸಿಕೊಂಡು
ವೇದ ಶಾಸ್ತ್ರ ಪುರಾಣ ಆಗಮದ ಬಹುಪಾಠಿಗಳು;
ಅನ್ನ ಹೊನ್ನು ವಸ್ತ್ರವ ಕೊಡುವವನ ಬಾಗಿಲ ಕಾಯುವ
ಮಣ್ಣ ಪುತ್ಥಳಿಯಂತಹ ನಿತ್ಯನಿಯಮದ ಹಿರಿಯರುಗಳು.
ಅದೆಂತೆಂದಡೆ:
"ವೇದವೃದ್ಧಾ ಅಯೋವೃದ್ಧಾಃ ಶಾಸ್ತ್ರವೃದ್ಧಾ ಬಹುಶ್ರುತಾಃ ।
ಇತ್ಯೇತೇ ಧನವೃದ್ಧಸ್ಯ ದ್ವಾರೇ ತಿಷ್ಠಂತಿ ಕಿಂಕರಾಃ ॥ – ಎಂದುದಾಗಿ
ಎಲ್ಲ ಹಿರಿಯರು ಲಕ್ಷ್ಮಿಯ ದ್ವಾರಪಾಲಕರು – ಗುಹೇಶ್ವರಾ. ||೯೪೨ ||

* * *

# ಪರಿಶಿಷ್ಟ

## ಜ್ಯೋತಿರ್ಮಯ ಶಾಂಭವಜ್ಞಾನ ದೀಕ್ಷಾಬೋಧೆಯಲ್ಲಿ ಬರುವ ವಚನಗಳು.

೧. ವೀರಶೈವ ಎಂಬುವದು, ಒಂದು ಅರಣ್ಯದ ಮಧ್ಯದಲ್ಲಿ ಒಬ್ಬ ಪರ್ಣಭಕ್ಷಕನು ಹೇಳಿದುದೂ ಅಲ್ಲ, ಒಬ್ಬ ಮಾಂಸಭಕ್ಷಕನು ಕೇಳಿದುದೂ ಅಲ್ಲ. ವೀರಶೈವ ಎಂಬುವದು ಒಂದು ವನದಲ್ಲಿದ್ದ ವಾಯುಭಕ್ಷಕನು ಹೇಳಿದುದೂ ಅಲ್ಲ, ಒಬ್ಬ ಸುರಾಪಾನ ಮಾಡುವವನು ಕೇಳಿದುದೂ ಅಲ್ಲ. ವೀರಶೈವ ಎಂಬುವದು ಒಂದು ಪರ್ವತದಲ್ಲಿ ಒಬ್ಬ ದೇಹಿ ಹೇಳಿದುದೂ ಅಲ್ಲ, ಒಬ್ಬ ದೇಹಧಾರಕನು ಕೇಳಿದುದೂ ಅಲ್ಲ. ವೀರಶೈವ ಎಂಬುವದು ಅನಂತಕೋಟಿ ವೇದ ಶಾಸ್ತ್ರ ಆಗಮ ಪುರಾಣ ಮಂತ್ರಾರ್ಥಸಾರಸುಧಾರಸವು. ಪರಮಶಿವ (ಪರಶಿವ) ಪರಮಾರ್ಥ ಪರತತ್ವ ಪರಮಾತ್ಮ, ಪರಬ್ರಹ್ಮ, ಪರಮಲಿಂಗ, ಪರಾಪರ ವಸ್ತುವಾದ ಪರಮೇಶ್ವರನು ಈ ವೇದಾಂತ (ವೇದಾರ್ಥ) ಸಾರ ಸುಧಾರಸವನು ಸೂಕ್ಷ್ಮವಾಗಿ ಸಂಗ್ರಹಿಸಿ ಹನ್ನೆರಡು ಕೋಟಿ, ಹನ್ನೆರಡು ಲಕ್ಷ, ಹನ್ನೆರಡು ಸಾವಿರ ಪರಮರಹಸ್ಯವ ಮಾಡಿ ಶಂಭುಮೂರ್ತಿ ಶಾಂಭವಿಗೆ ಉಪದೇಶವಿತ್ತ ಠಾವು. ಎಲ್ಲಿ ಎಂದಡೆ ಪರಮ ಚಿದಬ್ಧಿ ಎಂಬ ಸಮುದ್ರಮಧ್ಯದಲ್ಲಿ ಜ್ಯೋತಿರ್ಮಯ ಒಡಬಾನಲ ಮಂಟಪದಲ್ಲಿ ಒಂದು ನಿರುಪಮ ದಿವ್ಯ ಮಾಣಿಕ್ಯ ಸಿಂಹಾಸನ, ಆ ಸಿಂಹಾಸನ ಮಧ್ಯದಲ್ಲಿ ಅನಂತಕೋಟಿ ವೇದಂಗಳಿಗೆ ತಾಯಿಯಾದ ಗಾಯತ್ರಿಯ ಮಂತ್ರವನ್ನು ಹಾಸಿಗೆಯ ಮಾಡಿ, ಚಿತ್‌ಪ್ರಣವವ ಪಾದದ ಕಡೆಗೆ, ಶುದ್ಧಪ್ರಣವವ ಮಸ್ತಕದ ಕಡೆಗೆ ಮಾಡಿ, ಆ ಮಧ್ಯದಲ್ಲಿ ಪರಶಿವನು ಶಾಂಭವಿಗೆ ನಿರಂಜನ ಪ್ರಣವಯುಕ್ತನಾಗಿ ಉಪದೇಶಿಸಿದ ಪರಮರಹಸ್ಯ. ಈ ರಹಸ್ಯವನು ಪರಮ ಪರಾಪರ ಪರಮಾರ್ಥ ಪರಮಾತ್ಮ ಪರಬ್ರಹ್ಮ ಪರಶಿವಮೂರ್ತಿಯಾದ ಅಲ್ಲಮ ಪ್ರಭುದೇವರು ಕಲ್ಯಾಣ ಮಂಟಪದಲ್ಲಿ ಬಸವಾದಿ ಪ್ರಮಥ ಗಣಂಗಳಿಗೆ ಎರಡೆಂಬತ್ತು ಕೋಟಿ ವಚನಂಗಳಿಂದೆ ಉಪದೇಶವ ಮಾಡಿದರು. ಆ ಪರಮ ರಹಸ್ಯಾರ್ಥವನ್ನು ಪಾಲ್ಕುರಿಕೆಯ ಸೋಮೇಶ್ವರನು ಸಂಗಯ್ಯನೆಂಬ ಶರಣನಿಗೆ ನೂರರುವತ್ತು ವಚನವ ಮಾಡಿ ಉಪದೇಶಿಸಿದನು ಗುಹೇಶ್ವರನ ವಾಕ್ಯವನು:

---

ಮೊದಲು ಪಾರಮೇಶ್ವರಾಗಮದಲ್ಲಿ ನಿರ್ವಾಣಪಟಲದಲ್ಲಿ ಉಕ್ತವಾದ

**ಸರ್ವಶೂನ್ಯ ನಿರಾಲಂಬಸ್ಥಲ**

ಈ ಸ್ಥಲದ ಅನುಭಾವ ವಚನ

೨. ಆದಿ ಮಧ್ಯಾಂತವು ಇಲ್ಲದ, ನಾದ ಬಿಂದು ಕಳೆಗಳು ಇಲ್ಲದ, ಸಾವಯ ನಿರವಯವು ಇಲ್ಲದ, ರೂಪು ನಿರೂಪು ಇಲ್ಲದ, ಮಾಯ ನಿರ್ಮಾಯವಿಲ್ಲದ, ನಾಮ

ನಿರ್ನಾಮವಿಲ್ಲದ. ಸೀಮೆ ನಿಸ್ಸೀಮೆ ಇಲ್ಲದ, ಕಾಣುವದಕ್ಕೆ ಕೇಳುವದಕ್ಕೆ ಇಲ್ಲದ ನಿನ್ನ. ನೀನರಿಯದೆ ನೀನೇ ನೀನಾಗಿರ್ದಲ್ಲಿ ನಿನ್ನ ಕೋಟ್ಯಂಶದಲ್ಲಿ ನಿರಂಜನ ಕಳೆ ಹುಟ್ಟಿತ್ತು. ಈ ನಿರಂಜನ ಕಳೆಗೆ ನಾದ ಬಿಂದು ಕಳೆಗಳು ಇಲ್ಲ. ಆದಿ ಮಧ್ಯ ಅಂತ್ಯವಾದ ಅಂಗವಿಲ್ಲ. ಈ ಕಳೆಯೇ ನಾನು. ಆ ವಸ್ತುವೇ ನೀನು. ನಿರಂಜನ ಕಳೆಯೇ ಅಂಗವಾಗಿ ಆ ವಸ್ತುವೇ ಲಿಂಗವಾಗಿ ಕೂಡಲಿಕೆ ಕಾಷ್ಠದಲ್ಲಿ ಅಗ್ನಿ ಇದ್ದ ಹಾಗೆ ನಿರಂಜನ ಪ್ರಣವವೆಂದೂ. ಮಹಾಶೂನ್ಯ ಲಿಂಗವೆಂದೂ. ನಿನ್ನ ಹೇಳಲ್ಪಟ್ಟಿತ್ತು ಗುಹೇಶ್ವರಾ.

೩. ನೀವು ನಿಮ್ಮ ಸ್ವಲೀಲೆಯಿಂದ ನಿರಂಜನ ಪ್ರಣವದ ಕೋಟ್ಯಂಶದಲ್ಲಿ ಶೂನ್ಯ ಲಿಂಗವಾದಲ್ಲಿ ಆದಿ ಮಧ್ಯಾಂತಂಗಳಿಲ್ಲದ. ನಾದ ಬಿಂದು ಕಳೆಗಳಿಲ್ಲದ. ಸಾವಯ ನಿರವಯ ನಾಮ ನಿರ್ನಾಮ ಇಲ್ಲದ. ರೂಪು ನಿರೂಪು ನಿರ್ಮಾಯ ನಿಸ್ಸೀಮೆ ಇಲ್ಲದ, ಕಾಣುವದಕ್ಕೆ ಕೇಳುವದಕ್ಕೆ ಇಲ್ಲದ. ನಿನ್ನ. ನೀನರಿಯದೆ ನೀನೇ ನೀನಾಗಿರ್ದ (ಆ ಶೂನ್ಯ ಲಿಂಗದ) ಕೋಟ್ಯಂಶದಲ್ಲಿ ಪರಮ ಚಿತ್ಕಳೆ ಹುಟ್ಟಿತು. ಈ ಪರಮ ಚಿತ್ಕಳೆಗೆ ನಾದ ಬಿಂದು ಕಳೆಗಳು ಇಲ್ಲ. ಆದಿ ಮಧ್ಯಾಂತವಾದ ಅಂಗವಿಲ್ಲ. ಈ ಕಳೆಯೇ ನಾನು. ಆ ವಸ್ತುವೇ ನೀನು. ಪರಮ ಚಿತ್ಕಳೆಯೇ ಅಂಗವಾಗಿ ಆ ಶೂನ್ಯವಸ್ತುವೇ ಲಿಂಗವಾಗಿ ಕೂಡಲಿಕೆ ರನ್ನವೂ ರನ್ನದ ಕಾಂತಿಯೂ ಇದ್ದ ಹಾಗೆ ಶುದ್ಧಪ್ರಣವವೆಂದೂ ಸ್ವಯಂಭುಲಿಂಗವೆಂದೂ ಹೇಳಲ್ಪಟ್ಟಿತ್ತು ಗುಹೇಶ್ವರಾ.

೪. ನೀವು ನಿಮ್ಮ ಸ್ವಲೀಲೆಯಿಂದ ಶುದ್ಧ ಪ್ರಣವದ ಕೋಟ್ಯಂಶದಲ್ಲಿ ನಿಷ್ಕಲ ಲಿಂಗವಾದಲ್ಲಿ ಆದಿ ಮಧ್ಯಾಂತಂಗಳಿಲ್ಲದ ನಾದ ಬಿಂದು ಕಳೆಗಳಿಲ್ಲದ ಸಾವಯ ನಿರವಯ ಭಾವ ಸದ್ಭಾವ ನಿರ್ಭಾವ ಇಲ್ಲದ ರೂಪು ನಿರೂಪು ನಿಷ್ಕಾಯ ನಿರ್ನಾಮ ನಿರ್ಮಾಯ ಇಲ್ಲದ ಕಾರಣ. ಹೀಗಿರುವ ಕಾರಣದಿಂದ ಅರಿವು ಮರವೆಯು ಇಲ್ಲದ. ಮನ ಜ್ಞಾನ ಭಾವಮದಗಳಿಲ್ಲದ. ಜ್ಞಾತೃ ಜ್ಞಾನ ಜ್ಞೇಯಗಳಿಲ್ಲದ. ಜ್ಞಾನ ಸುಜ್ಞಾನಗಳಿಲ್ಲದ ದ್ವೈತಾದ್ವೈತವಿಲ್ಲದ ನಿನ್ನ ನೀನರಿಯದೆ ನೀನೇ ನೀನಾಗಿರ್ದ ಕೋಟ್ಯಂಶದಲ್ಲಿ ಸಚ್ಚಿದಾನಂದ ಕಳೆ ಹುಟ್ಟಿತ್ತು. ಈ ಸಚ್ಚಿದಾನಂದ ಕಳೆಗೆ ನಾದ ಬಿಂದು ಕಳೆಗಳಿಲ್ಲ. ಆದಿ ಮಧ್ಯಾಂತವಾದ ಅಂಗವಿಲ್ಲ. ಈ ಕಳೆಯೇ ನಾನು. ಆ ವಸ್ತುವೇ ನೀನು. ಸಚ್ಚಿದಾನಂದ ಕಳೆಯೇ ಅಂಗವಾಗಿ ಆ ವಸ್ತುವೇ ಲಿಂಗವಾಗಿ ಕೂಡಲು ಮಂಜು ಅದರ ಶೈತ್ಯದ ಹಾಗೆ ಚಿತ್ಪ್ರಣವವೆಂದೂ ಆದಿ ಮಹಾಲಿಂಗವೆಂದೂ ಹೇಳಲ್‌ಪಟ್ಟಿತ್ತು ಗುಹೇಶ್ವರಾ.

೫. ನೀವು ನಿಮ್ಮ ಸ್ವಲೀಲೆಯಿಂದ ಚಿತ್‌ಪ್ರಣವದ ಕೋಟ್ಯಂಶದಲ್ಲಿ ನಿಷ್ಕಲ ಶಿವನಾದಲ್ಲಿ ಘೃತಕಾಠಿಣ್ಯ ನ್ಯಾಯದ ಹಾಗೆ ಸಮಸ್ತ ಮೂರ್ತಿಗಳ ಸಮಸ್ತ ಶಕ್ತಿಗಳ ಸಮಸ್ತ ತತ್ವಂಗಳ ಸಮಸ್ತ ಬ್ರಹ್ಮಾಂಡಗಳ ತನ್ನಲ್ಲಿ ಉತ್ಪತ್ತಿ ಸ್ಥಿತಿ ಲಯಂಗಮಂಗಳನೆ ಮಾಡಿ ತಾನೇ ಆಶ್ರಯವಾಗಿ ತಾನೇ ನೋಡಿ ಸಂತೋಷಿಸಿ ತನ್ನ ಹೊರಗ ಕಾಣಸದೆ ಅನಂತಕೋಟಿ ಸೂರ್ಯ ಚಂದ್ರಾಗ್ನಿ ಕಳೆಗಳಂ ಮೀರಿ ಅನುಪಮ ಚಿದ್ರೂಪ ಸ್ವರೂಪವಾದ ಆ ನಿಷ್ಕಲ ಶಿವನ ಕೋಟ್ಯಂಶದಲ್ಲಿ ಪರಮ ಕಳೆ ಹುಟ್ಟಿತ್ತು. ಈ ಪರಮ ಕಳೆ ನಾದ ಬಿಂದು ಕಳಾ

ಸ್ವರೂಪವಾಗಿ ಅನಂತಕೋಟಿ ಸೂರ್ಯ ಚಂದ್ರಾಗ್ನಿ ಪ್ರಕಾಶವಾಗಿ ಸಮಸ್ತ ಶಕ್ತಿಗಳೊಡನೆ ಸಮಸ್ತ ಮೂರ್ತಿಗಳೊಡನೆ ಸಮಸ್ತ ತತ್ವಂಗಳೊಡನೆ ಸಮಸ್ತ ಬ್ರಹ್ಮಾಂಡಗಳೊಡನೆ ಹುಟ್ಟಿತ್ತು. ಈ ಪರಮ ಕಳೆಯೇ ನಾನು. ಆ ವಸ್ತುವೇ ನೀನು. ಪರಮ ಕಳೆಯೇ ಅಂಗವಾಗಿ, ಆ ವಸ್ತುವೇ ಲಿಂಗವಾಗಿ ಕೂಡಲು ಕ್ಷೀರದೊಳಗಣ ಘೃತದ ಹಾಗೆ ಸಮಸ್ತ ಭಕ್ತ ಹಿತಾರ್ಥವಾಗಿ ಸಾಕಾರವೆನಿಸಿ ಓಂಕಾರ ಪ್ರಣವವೆಂದೂ ಮಹಾಲಿಂಗವೆಂದೂ ಹೇಳಲ್ಪಟ್ಟಿತ್ತು ನಿನ್ನ ಗುಹೇಶ್ವರಾ.

ಇದು ಸರ್ವ ಶೂನ್ಯ ನಿರಾಲಂಬ ಸೃಷ್ಟಿ.

---

### ಶೂನ್ಯ ನಿರಾಲಂಬಸ್ಥಲ.

೬. ಆ ಅಖಂಡ ಪರಿಪೂರ್ಣ ತೇಜೋಮಯ ಗೋಳಕಾಕಾರ ಮಹಾಲಿಂಗದಲ್ಲಿ ವಾಚ್ಯ ಸೃಷ್ಟಿ, ಅವಾಚ್ಯಸೃಷ್ಟಿ ಎಂದು ಎರಡು ಪ್ರಕಾರವಾಯಿತು. ಆ ಎರಡರಲ್ಲಿ ವಾಚ್ಯ ಸೃಷ್ಟಿ ಹೇಗೆಂದೊಡೆ:– ಆ ಮಹಾಲಿಂಗದಲ್ಲಿ ಈಶ್ವರ, ಸದಾಶಿವ, ಪರಮೇಶ್ವರರೆಂದು ತ್ರಿಮೂರ್ತಿಗಳು ಹುಟ್ಟಿ ಸಕಲ, ಸಕಲ ನಿಷ್ಕಲ, ಕೇವಲನಿಷ್ಕಲರೆನಿಸಿ ಸಕಲ ಮೂರ್ತಿಗಳ ಸಕಲ ತತ್ವಂಗಳ ಸಕಲ ಬ್ರಹ್ಮಾಂಡಗಳ ಹುಟ್ಟಿಸಿ ತಮ್ಮಲ್ಲಿಯೇ ವಿನೋದಿಸುವರು ಗುಹೇಶ್ವರ ಲಿಂಗದಲ್ಲಿ.

ಇದು ಶೂನ್ಯ ನಿರಾಲಂಬ ಸೃಷ್ಟಿ.

---

### ನಿರಾಳಸ್ಥಲ.

೭. ಅಖಂಡ ಪರಿಪೂರ್ಣ ತೇಜೋಮಯ ಗೋಳಕಾಕಾರ ಮೂರ್ತಿಯಾದ ಮಹಾಲಿಂಗವು. ವಿಶ್ವತೋ ಮುಖ ವಿಶ್ವತೋ ನೇತ್ರ ವಿಶ್ವತೋ ಬಾಹು ವಿಶ್ವತಃ ಪಾದ ಸರ್ವ ಪರಿಪೂರ್ಣ ಸರ್ವಜ್ಞ ಮೂರ್ತಿಯಾಗಿರುವುದು. ವಟಬೀಜ ನ್ಯಾಯದಂತಿರ್ದ ಆ ಮಹಾಲಿಂಗದ ಸಹಸ್ರಾಂಶದಲ್ಲಿ ಚಿಚ್ಛಕ್ತಿ ಹುಟ್ಟಿತು. ಆ ಚಿಚ್ಛಕ್ತಿಯ ಸಹಸ್ರಾಂಶದಲ್ಲಿ ಪರಮೇಶ್ವನು ಹುಟ್ಟಿದನು. ಆ ಪರಮೇಶ್ವರನಿಗೆ ಏಕಮುಖ ತ್ರಿನೇತ್ರ ದ್ವಿಹಸ್ತ ದ್ವಿಪಾದ ತನುವೇಕ. ಆನಂದಮಯನಾಗಿ ಕಳೆಗಳನೆಲ್ಲ ಮೀರಿರ್ಪನು. ಜ್ಞಾನಗಮ್ಯನಾಗಿರ್ದ ಆ ಪರಮೇಶ್ವರನ ಸಹಸ್ರಾಂಶದಲ್ಲಿ ಸದಾ ಶಿವನು ಹುಟ್ಟಿದನು. ಆ ಸದಾಶಿವನಿಗೆ ದ್ವಿಮುಖ ಷಡುನೇತ್ರ ನಾಲ್ಕುಹಸ್ತ ದ್ವಿಪಾದ ತನುವೇಕ, ಸುವರ್ಣ ವರ್ಣ. ಮನೋಗಮ್ಯ ಮೂರ್ತಿಯಾಗಿದ್ದ ಆ ಸದಾಶಿವನ ಸಹಸ್ರಾಂಶದಲ್ಲಿ ಆದಿಶಕ್ತಿ ಹುಟ್ಟಿತು. ಆ ಆದಿಶಕ್ತಿಯ ಸಹಸ್ರಾಂಶದಲ್ಲಿ ಈಶ್ವರನು ಹುಟ್ಟಿದನು. ಆ ಈಶ್ವರ ಮೂರ್ತಿಗೆ ತ್ರಿಮುಖ ನವನೇತ್ರ ಷಡುಹಸ್ತ ದ್ವಿಪಾದ ತನುವೇಕ ಧವಳ ವರ್ಣ ಶರೀರ. ಅಹಂಕಾರ ಗಮ್ಯಮೂರ್ತಿಯಾಗಿದ್ದ ಆ ಈಶ್ವರನ ಸಹಸ್ರಾಂಶದಲ್ಲಿ ಇಚ್ಛಾಶಕ್ತಿ ಹುಟ್ಟಿತು. ಆ ಇಚ್ಛಾಶಕ್ತಿಯು ಸಹಸ್ರಾಂಶದಲ್ಲಿ ಮಹೇಶ್ವರನು ಹುಟ್ಟಿದನು. ಆ ಮಹೇಶ್ವರನಿಗೆ ಚತುರ್ಮುಖ ದ್ವಾದಶನೇತ್ರ ಎಂಟುಹಸ್ತ ದ್ವಿಪಾದ ತನುವೇಕ. ಸ್ಫಟಿಕವರ್ಣದ ಶರೀರ. ಬುದ್ಧಿಗಮ್ಯನಾಗಿದ್ದ ಆ ಮಹೇಶ್ವರನ

ಸಹಸ್ರಾಂಶದಲ್ಲಿ ಜ್ಞಾನಶಕ್ತಿ ಹುಟ್ಟಿತು. ಆ ಜ್ಞಾನಶಕ್ತಿಯ ಸಹಸ್ರಾಂಶದಲ್ಲಿ ಶ್ರೀ ರುದ್ರಮೂರ್ತಿ ಹುಟ್ಟಿದನು. ಆ ಶ್ರೀ ರುದ್ರನಿಗೆ ಪಂಚಮುಖ ದಶಭುಜ ದಶಪಂಚ (ಪಂಚದಶ) ನೇತ್ರ ದ್ವಿಪಾದ ಕುಂಕುಮವರ್ಣದ ಶರೀರವೇಕ. ಚಿತ್ತಗವ್ಯ ಮೂರ್ತಿಯಾಗಿದ್ದ ಆ ಶ್ರೀ ರುದ್ರನ ಸಹಸ್ರಾಂಶದಲ್ಲಿ ಕ್ರಿಯಾಶಕ್ತಿ ಹುಟ್ಟಿತು. ಆ ಕ್ರಿಯಾಶಕ್ತಿಯ ಸಹಸ್ರಾಂಶದಲ್ಲಿ ನಾನಾವರ್ಣ ಸ್ವರೂಪನಾದ ಈಶಾನಮೂರ್ತಿ ಹುಟ್ಟಿದನು. ಆ ಈಶಾನ ಮೂರ್ತಿಯು ಸಮಸ್ತ ವರ್ಣಗಳೊಡನೆ ಸಮಸ್ತ ನಾದಂಗಳೊಡನೆ ಸಮಸ್ತ ರೂಪಂಗಳೊಡನೆ ಸಮಸ್ತವೂ ತಾನೇ ಆದ ಹಾಗೆ ಸಗುಣನಾಗಿ, ಸಗುಣ ನಿರ್ಗುಣನಾಗಿ, ಕೇವಲ ನಿರ್ಗುಣನಾಗಿ ವರ್ತಿಸುತ್ತಿಹನು. ಅವಯನಾಗಿ (ಸಾವಯನಾಗಿ) ನಿರವಯನಾಗಿ ಷಡುವಕ್ತ್ರ, ದ್ವಾದಸ ಹಸ್ತ, ಅಷ್ಟಾದಶ ನೇತ್ರ, ದ್ವಿಪಾದ, ತನುವೇಕವಾಗಿರ್ಪನು. ಹೀಂಗೆ ನೀನಾಗಿದ್ದೆಯಲ್ಲಾ ಗುಹೇಶ್ವರಾ.

ಇದೀಗ ನಿರಾಳ ಸೃಷ್ಟಿ.

---

೯. ಆ ಈಶಾನಮೂರ್ತಿಯ ಆರು ಮುಖವನು ವೇದ ಶಾಸ್ತ್ರ ಪುರಾಣಾಗಮ ಮಂತ್ರಂಗಳು ನಿರ್ಣಯಿಸಲಾರವು. ಮನು ಮಾಂಧಾತರಿಗೆ ವಾಙ್ಮನಕ್ಕೆ ಅಗೋಚರ. ಅಂತಿರ್ದ ಸಹಜ ಚಿನ್ಮಯ 'ಮಹಾತತ್ವ' (ಮಹತ್ವ) ಗೋಪ್ಯಮುಖದಲ್ಲಿ ನಂದೀಶ್ವರ, ಭೃಂಗೀಶ್ವರ, ದಾರುಕ, ರೇಣುಕ, ಸೌಂದರ, ಸುಮುಖ, ಸುನಾದ, ಭದ್ರ, ವೀರಭದ್ರ ಮೊದಲಾದ ಪ್ರಮಥ ಗಣಂಗಳೂ ಮೃಣ್ಮಯರುದ್ರ, ಕಾಲಾಗ್ನಿರುದ್ರ, ಶರಭರುದ್ರ, ಸದಾಶಿವರುದ್ರ ಮೊದಲಾದ ರುದ್ರಗಣಂಗಳೂ ಹುಟ್ಟಿ ಅವರು ಲಿಂಗಾಂಗ ಲಿಂಗೇಂದ್ರಿಯ ಲಿಂಗಪ್ರಾಣ ಲಿಂಗ 'ಮನೋ'ಗತರಾಗಿದ್ದರು ಗುಹೇಶ್ವರಾ.

ಇದು ಈಶಾನ ಮೂರ್ತಿಯ ನಿರ್ಮಲ ಸೃಷ್ಟಿ.

---

೬. ಆ ನಿರಾಲಂಬ ಮೂರ್ತಿಯಾದ ಈಶಾನ ಮೂರ್ತಿಯು ಸಹಸ್ರಾಂಶದಲ್ಲಿ ಸದಾಶಿವಮೂರ್ತಿ ಹುಟ್ಟಿದನು. ಆ ಸದಾಶಿವಮೂರ್ತಿಗೆ ಪಂಚವಕ್ತ್ರ, ದಶಭುಜ, ದಶಪಂಚನೇತ್ರ ದ್ವಿಪಾದ ತನುವೇಕ ಶುದ್ಧ ಸ್ಫಟಿಕ. 'ಸದ್ಯೋನ್ಮುಕ್ತ' (ಪ್ರದ್ಯೋತ) ಸಕಲಾಭರಣ ಭೂಷಿತನಾದ ಆ ಸದಾಶಿವಮೂರ್ತಿಯ ಸಹಸ್ರಾಂಶದಲ್ಲಿ ಸುವರ್ಣ ಛಾಯೆಯುಳ್ಳ ಚಿಚ್ಛಕ್ತಿ ಹುಟ್ಟಿದಳು. ಆ ಚಿಚ್ಛಕ್ತಿಯ ಸಹಸ್ರಾಂಶದಲ್ಲಿ ಶಿವನು ಹುಟ್ಟಿದನು. ಆ ಶಿವಮೂರ್ತಿಗೆ ತ್ರಿಮುಖ, ನವನೇತ್ರ, ಷಡುಹಸ್ತ, ದ್ವಿಪಾದ, ತನುವೇಕ, ಧವಳವರ್ಣವನುಳ್ಳ ಆ ಶಿವಮೂರ್ತಿಯ ಸಹಸ್ರಾಂಶದಲ್ಲಿ ಧವಳವರ್ಣದ ಜ್ಞಾನಶಕ್ತಿ ಹುಟ್ಟಿತು. ಆ ಜ್ಞಾನಶಕ್ತಿಯ ಸಹಸ್ರಾಂಶದಲ್ಲಿ ಒಬ್ಬ ಶ್ರೀಕಂಠ ರುದ್ರಮೂರ್ತಿಯು ಹುಟ್ಟಿದನು. ಆ ಶ್ರೀಕಂಠಮೂರ್ತಿಗೆ ಏಕವಕ್ತ್ರ, ತ್ರಿನೇತ್ರ, ದ್ವಿಹಸ್ತ, ದ್ವಿಪಾದ, ತನುವೇಕ ಕೆಂದಾವರೆಯವರ್ಣವಾದ ಶರೀರದ ಶ್ರೀಕಂಠರುದ್ರ ಮೂರ್ತಿಯ ಸಹಸ್ರಾಂಶದಲ್ಲಿ ಹರಿತವರ್ಣವಾದ ಕ್ರಿಯಾಶಕ್ತಿ ಹುಟ್ಟಿದಳು. ಆ ಕ್ರಿಯಾಶಕ್ತಿಯ ಸಹಸ್ರಾಂಶದಲ್ಲಿ ವಿಷ್ಣು

ಹುಟ್ಟಿದನು. ಆ ವಿಷ್ಣುವಿನ ಸಹಸ್ರಾಂಶದಲ್ಲಿ ಲಕ್ಷ್ಮಿ ಹುಟ್ಟಿದಳು. ಆ ಲಕ್ಷ್ಮಿಯ ಸಹಸ್ರಾಂಶದಲ್ಲಿ ಬ್ರಹ್ಮನು ಹುಟ್ಟಿದನು. ಆ ಬ್ರಹ್ಮನ ಸಹಸ್ರಾಂಶದಲ್ಲಿ ಸಕಲ ಚರಾಚರಂಗಳು ಹುಟ್ಟಿದವು. ಇವೆಲ್ಲಾ ಸರ್ವಶೂನ್ಯ ನಿರಾಲಂಬ ಮೂರ್ತಿಯು ಆಡಿಸಿದರೆ ಆಡುವವು. ಬೇಡವೆಂದರೆ ಮಾಣುವವು ಗುಹೇಶ್ವರಾ.

ಇದು ಸೃಷ್ಟಿ.

---

೧೦. ಈ ಸೃಷ್ಟಿಯಲ್ಲಿ ರುದ್ರ ಮಾಹೇಶ್ವರ ಸದಾಶಿವಮೂರ್ತಿಗಳು ಶುದ್ಧ ತತ್ವ ಸ್ವರೂಪರು. ಲಿಂಗಧ್ಯಾನದಿಂದೆ ದೇವತ್ವ ಉಂಟಾಗಿ ಕಾಮ ಕಾಲಾದಿಗಳ ಜಯಿಸಿದ ಕಾರಣ ಪರಮಾತ್ಮರಾದರು. ಹರಿ ಬ್ರಹ್ಮಾದಿಗಳು ಶುದ್ಧಾಶುದ್ಧ ತತ್ವ ಸ್ವರೂಪ ಮೂರ್ತಿಗಳಾಗಿ ಆತ್ಮಧ್ಯಾನದಿಂದೆ ದೇವತ್ವ ಉಂಟಾಗಿ ಕಾಮ ಕಾಲಾದಿಗಳಿಗೆ ವಶರಾದ ಕಾರಣ ಅಂತರಾತ್ಮರಾದರು. ನರರು ಸುರಾಸುರರು ಅಶುದ್ಧ ತತ್ವ ಸ್ವರೂಪರಾಗಿ ಶರೀರ ಧ್ಯಾನದಿಂದ ಜೀವಾತ್ಮರುಗಳಾಗಿ ಕಾಮ ಕಾಲಾದಿಗಳಿಗೆ 'ಒಳಗಾದರು. ಅದು ಕಾರಣ' ಜೀವಾತ್ಮರಾದರು. ಇದು ವೇದಂಗಳಲ್ಲಿಯೂ ವಿವರಿಸಿ ನೋಡಿದರೆ. ಲಿಂಗಲೀಲೆಯಿಂದಾದುದು ಗುಹೇಶ್ವರಾ.

೧೧. ಈ ಶರೀರ ಧ್ಯಾನದಿಂದೆ ಸರ್ವ ಜಗತ್ತು ಮೂವತ್ತುಮೂರು ಕೋಟಿ ಇಂದ್ರಿಯಂಗಳಿಗೆ ಅರುವತ್ತಾರುಕೋಟಿ ಕರಣಂಗಳಿಗೆ ಅನುಕೂಲವಾಗಿ ಸ್ತುತಿಗೆ ಹಿಗ್ಗುತ್ತ ನಿಂದೆಗೆ ತಗ್ಗುತ್ತ ದುಃಖಕ್ಕೆ ಕುಗ್ಗುತ್ತ ಸುಖಕ್ಕೆ ಹಿಗ್ಗುತ್ತ ಸತ್ಯ. ಶೌಚ. ಶಾಂತಿ. ದಾಂತಿ. ಸಮತೆ. ಸೈರಣೆ. ದಯೆ. ದಾಕ್ಷಿಣ್ಯ, ದಾನ. ಧರ್ಮಂಗಳಿಲ್ಲದೆ ದುರಾಚಾರ. ದುರ್ಮಾರ್ಗ. ದುಶ್ಚಿಂತೆ. ದುರ್ಮೋಹ, ದುರ್ನೀತಿ. ದುರ್ವಾಕ್ಯಂಗಳಿಂದ ಮಹಾ ಪಾತಕ ಸ್ವರೂಪರಾಗಿ ಭವಾಂಬುಧಿಯಲ್ಲಿ ಮುಳುಗುತ್ತೇಳುತ್ತ ತಡಿಯ ಸೇರಲಾರದಿರ್ದ ಕಾರಣ ಗುಹೇಶ್ವರನು ಅವರಿಗೆ ಸಾಕ್ಷಿಯಾಗಿಪ್ಪನು.

೧೨. ಈ ರೀತಿಯಲ್ಲಿ ಜೀವಕೋಟಿ ಇರಲಾಗಿ ಒಬ್ಬ ಪುಣ್ಯಾತ್ಮನು ಸತ್ಯ ದಯಾ ಶೌಚ ಶಾಂತಿಯುಳ್ಳವನಾಗಿ ಅನೇಕ ಜಪ ತಪ ನಿಯಮ ನಿಷ್ಠೆ ದಾನ ಧರ್ಮಂಗಳ ಮಾಡಲಾಗಿ ಮನಸ್ಸಿನ ಮಲಿನವು ಹೋಗಿ ಈ ದೇಹವು ಮಹಾ ಪಾತಕಂಗಳಿಗೆ ಆಶ್ರಯವೆಂದು ತಿಳಿದು ಎಲೆ ಪರಮೇಶ್ವರಾ. ಈ ದೇಹ ರೂಪವ ನೋಡಲು ಇದು ಚರ್ಮ, ರೋಮ. ನರ. ಮಾಂಸ. ಮಜ್ಜಾ. ಅಸ್ಥಿ. ಶುಕ್ಲ. ಶೋಣಿತ. ಮಲಮೂತ್ರಗಳಿಂದ ಆದುದು. ಈ ದೇಹ ಲಕ್ಷಣವ ನೋಡಿದರೆ ಮಾತೃ ಗರ್ಭದಲ್ಲಿ ಅಮೇಧ್ಯ ಮೂತ್ರಮಧ್ಯದಿ ನೆನೆದುದು. ಅದರ ಮೇಲೆ ಮೂತ್ರ ದ್ವಾರದಲ್ಲಿ ರಕ್ತಮಯವಾಗಿ ಹುಳುವಿನಂದದಿ ಬಿದ್ದುದು. ಮತ್ತಂ ಶಿಶುವಾಗಿ ಕೆಲವು ದಿನ ಅಮಂಗಲವಾಗಿ ಇದ್ದುದು. ಅದರ ಮೇಲೆ ಬಾಲ ಯೌವನ ಕೌಮಾರ ಮುಪ್ಪುಳ್ಳುದು. ಮತ್ತೆ ಅಂಗ ಗುಣಂಗಳ ನೋಡಲು ಕಾಮ ಕ್ರೋಧ ಲೋಭ ಮೋಹ ಮದ ಮತ್ಸರ ಉಳ್ಳುದು. ಸುಖ ದುಃಖವ ನೋಡಲು ಫಣಿ. ರಾಜ. ಪಶು.

ಮೃಗ, ಪಕ್ಷಿ, ಜಲ, ವಾಯು, ಸಿಡಿಲು, ಶೀತ, ಉಷ್ಣ, ಮಹಾ ರೋಗಂಗಳು, ಇವುಗಳ ಭಯ, ಕ್ಷುಧೆ ತೃಷ್ಣಾದಿಗಳು ಉಳ್ಳುದು. ಮತ್ತಂ 'ನಿತ್ಯವ' ನೋಡಲು ಘಳಿಗೆಯೋ ಎರಡು ಘಳಿಗೆಯೋ ಜಾವವೋ ದಿನವೋ ಮಾಸವೋ ವರುಷವೋ ತಿಳಿಯಬಾರದು. ಈ ದೇಹವನಾದರೂ ನಂಬಿರ್ದೇನೆಂದರೆ ಐಶ್ವರ್ಯವು ಮರೀಚಿಕಾ ಜಲದಂತೆ, ಮನದಾಸೆಯು ಬೆಟ್ಟದಂತೆ, ಯೌವನವು ಮಿಂಚಿನಂತೆ, 'ದಾರ್ಷ್ಟ್ಯ'ವು ಹೂಬಿಸಿಲಿನಂತೆ, ಸಂಸಾರ ಇಂದ್ರಜಾಲದಂತೆ, ಭೋಗವು ದರ್ಪಣದ ಬಿಂಬದಂತೆ, ಶರೀರವು ನೀರಗುಳ್ಳೆಯಂತೆ, ಪ್ರಾಣವು ಬಯಲಿನಂತೆ, ಬಾಧೆಗಳು ಸಮುದ್ರದ ತೆರೆಗಳಂತೆ. ಈ ದೇಹ ಭಾರವ ಆವ ಉಪಾಯದಲ್ಲಿ ಇಳುಹಬೇಕೆಂದಡೆ, ರೂಪಾದ ವಸ್ತುವಿನಿಂದ ಇಳಿಸಿಹೆನೆಂದೊಡೆ 'ರೂಪು' ಎಲ್ಲಾ ನಷ್ಟ. ಅರೂಪಾದ ವಸ್ತುವಿನಿಂದ ಇಳಿಸಿಹೆನೆಂದೊಡೆ ಅರೂಪು ಕಾಣದಂತೆ ಇರ್ಪುದು. ಈ ದೇಹ ಭಾರವು ಆರಿಂದ ಇಳಿವುದೋ ಗುಹೇಶ್ವರಾ.

೧೩. ಈ ರೋತೆಯ ದುರ್ಗಂಧ ಶರೀರೋಪಾಧಿಯ ನೀಗುವ ತೆರನೆಂತೋ ?

ಕರ್ಮದಿಂದ ಬಿಡಿಸಿಹೆನೆಂದೊಡೆ ಕರ್ಮವ ಮಾಡಿದಲ್ಲಿ ದೇಹವನೆತ್ತಬೇಕು. ದೇಹವನೆತ್ತಿದಲ್ಲಿ ಕರ್ಮವ ಮಾಡಬೇಕು. ಆ ಕರ್ಮಕ್ಕೆ ದೇಹಕ್ಕೆ ಬೀಜವೃಕ್ಷನ್ಯಾಯವೆಂದಡೆ ಕರ್ಮವು ಜಡ. ಕರ್ಮ ಕರ್ತೃ ಬೇರೆ ಉಂಟು. ಕರ್ಮದಿಂದ ದೇಹ ಭಾರವು ತೀರದು. ಕಾಣಲ್ಪಟ್ಟ ಕ್ರಿಯೆಗಳೆಲ್ಲಾ ಅಬದ್ಧ.

ಜ್ಞಾನದಿಂದ ದೇಹಭಾರವ ಇಳಿಸಿಹೆನೆಂದೊಡೆ ಜ್ಞಾನವು ಹೇಗೋ ತಿಳಿಯದು ! ಶಾಸ್ತ್ರ ಜನ್ಯ ಜ್ಞಾನದಿಂದ ದೇಹಭಾರವನು ಇಳಿಸಿಹೆನೆಂದೊಡೆ ಆ ಶಾಸ್ತ್ರ ಜನ್ಯ ಜ್ಞಾನದಿಂದ ತೀರದು. ಸಹಜ ಜ್ಞಾನಹೇಗೆಂದಡೆ :– ಗಾಳಿ ಇಲ್ಲದ ದೀಪದಂತೆ, ಚಂದ್ರ ಸೂರ್ಯ ನಕ್ಷತ್ರ ಮೇಘಂಗಳಿಲ್ಲದ ನಿರ್ಮಲಾಕಾಶದಂತೆ, ರೆಕ್ಕೆಗಳಿಲ್ಲದ ಪಕ್ಷಿಯಂತೆ, ಎಲೆಯಿಲ್ಲದ ವೃಕ್ಷದಂತೆ, ಇದು ತ್ರಿಲೋಕದಲ್ಲಿ ದುರ್ಲಭ ಇದರಿಂದ, ಅಂತು ದೇಹ ಭಾರವು ತೀರುವೊಡೆ ಇಂತಪ್ಪ ಜ್ಞಾನ ಎಂದಿಗೆ ಸಾಧ್ಯವಹುದೋ ಗುಹೇಶ್ವರಾ ?

೧೪. ಸವತೆಯ ಹಣ್ಣಿಗೆ ವಜ್ರದ ಕಟ್ಟು ಹಾಕಿದ ಹಾಗೆ, 'ಬಾಳೆ'ಯ ಹಣ್ಣು ಕಬ್ಬುನದ ಉಗುರಿನಲ್ಲಿ ಸುಲಿವಂತೆ, ಜಾಜಿಯ ಹೂವನು ಹುರಿದಂತೆ, ಶಿಶುವಿನ ಶಿರದಲ್ಲಿ ಪರ್ವತವ ಮಡುಗಿದಂತೆ, ಇರುವ ಈ ದೇಹ ಭಾರವನ್ನು ಹೊರೆಯಲಾರೆನಯ್ಯ. ಅದೆಂತೆಂದಡೆ :– ತಾಯ ಗರ್ಭದಲ್ಲಿ ಪಿಂಡವು ಇರುವುದು, ಮೊಟ್ಟೆಯ ಕಟ್ಟಿ ನೀರಿನಲ್ಲಿ ಹಾಕಿ ಮೇಲೆ ಪರ್ವತವನ್ನಿರಿಸಿದಂತೆ. ಅಮೇಧ್ಯ ಮೂತ್ರ ಮಧ್ಯದಲ್ಲಿ ನಿಲ್ಲಬಾರದು, ದುರ್ಗಂಧ. ಆ ತಾಯ ಗರ್ಭದಲ್ಲಿ ಅಸ್ಥಿರವಾಗಿರದೆ ತ್ರಿಶೂಲದಲ್ಲಿ ಇರಿದಂತೆ. ಆ ತಾಯಿ ನೀರು ಕುಡಿದರೆ ಹಿಡಿಗಲ್ಲು ಬಿದ್ದಂತೆ. ಆ ತಾಯಿ ಉಂಡ ಅನ್ನದ 'ಭೋಜ್ಯ' (ತುತ್ತು)ಕಾರ ಸಿಡಿಲು ಬಿದ್ದಂತೆ. ಆ ತಾಯಿ ಕುಡಿದ ತಿಂದ ಕಾರವು ಕಾಳಕೂಟ ವಿಷದಂತೆ. ಆ ತಾಯಿ ಹಸಿದಿದ್ದರೆ ಕಾಡಕಿಚ್ಚಿನಲ್ಲಿ ಸಿಕ್ಕಿದಂತೆ. ಆ ತಾಯಿ 'ಸೀರೆಯ' ಬಿಗಿದು ಉಟ್ಟರೆ ಕಾಲಪಾಶದಲ್ಲಿ ಬಿಗಿದಂತೆ. ಆ ತಾಯಿ ನಡೆವಲ್ಲಿ ಕುಂಬಳಕಾಯನೆತ್ತಿ ಹಾಕಿದಂತೆ. ಆ ತಾಯಿ ಕೋಪಿಸಿದಡೆ

ಕುಪ್ಪಟಿಯಲ್ಲಿ ಬಿದ್ದಂತೆ. ಆ ತಾಯಿ ನಿದ್ರೆಯಲ್ಲಿ ಉಚ್ಛ್ವಾಸ ನಿಶ್ವಾಸಗೆಯ್ವಲ್ಲಿ 'ಕೂರಂಬಿನಿಂದೆ ಎಸೆದಂತೆ' ಆ ತಾಯ ಗರ್ಭದಲ್ಲಿ 'ಕಿಲುಬು ಹುಳ' ಕಡಿವರೆ ಕಾಳಸರ್ಪ ಮಿಡಿಗಪ್ಪೆಯ ಕಡಿದಂತೆ. ಅಂತಲ್ಲದೆ ಕದಲ 'ಬದಲ' ಕೂಡಲು ಅದರಿಂದ ಪಿಂಡಕ್ಕೆ........ ಮೊದಲ ಮಾಸಕ್ಕೆ ನಿಮಿಷಕ್ಕೆ ನೂರುಕೋಟಿ ಬಾಧೆ. ಎರಡನೆಯ ಮಾಸಕ್ಕೆ ಐವತ್ತು ಕೋಟಿ ಬಾಧೆ. ಮೂರನೆಯಮಾಸಕ್ಕೆ ಇಪ್ಪತ್ತೈದುಕೋಟಿ ಬಾಧೆ. ನಾಲ್ಕನೆಯ ಮಾಸಕ್ಕೆ ಹನ್ನೆರಡುಕೋಟಿ ಬಾಧೆ. ಐದನೆಯ ಮಾಸಕ್ಕೆ ಆರುಕೋಟಿ ಬಾಧೆ. ಆರನೆಯ ಮಾಸಕ್ಕೆ ಮೂರುಕೋಟಿ ಬಾಧೆ. ಅದರ ಮೇಲೆ ದಿವ್ಯಜ್ಞಾನ ಹುಟ್ಟಿ ಹಿಂದಿನ ಜನ್ಮ ನೂರು ಮುಂದಿನ ಜನ್ಮ ನೂರು ಜಾತಿಸ್ಮರತ್ವವನರಿದು ತನ್ನ ಹೀನಾಧಿಕ ಜನ್ಮವನು. ತನ್ನ ಸ್ವರ್ಗ ನರಕವನು. ತನ್ನ ಸುಖ ದುಃಖವನು. ತನ್ನ ಸ್ತುತಿ ನಿಂದೆಯನು. ತನ್ನ ಕರ್ತೃತ್ವ 'ಭೃತ್ಯತ್ವ' (ಭೋಕ್ತೃತ್ವ) ತನ್ನ ಸಿರಿ ಬಡತನವನು. ತನ್ನ ರೂಪು ಕುರೂಪನು. ತನ್ನ ಸತ್ಯಾಸತ್ಯವನು ತಿಳಿದು ಸರ್ವರಲ್ಲಿಯೂ ಶಿವನೇ ಪೂಜ್ಯನೆಂದರಿದು ಸರ್ವರೂ ಪೂಜಕರೆಂದರಿದು.

ತರಣಿಸ್ತನ್ಮಧ್ಯೇ ಗತಂ ಜ್ಯೋತಿರ್ಮಯ ಪರಾತ್ಪರಂ

ಎಂಬ ಶ್ರುತಿ ಸಾಕ್ಷಿಯಾಗಿ ನೋಟಕ್ಕೆ ಶಿವನೇ ಕರ್ತೃ

ಅಸೌ ಯೋಽವಸರ್ಪತಿ ನೀಲಗ್ರೀವೋ ವಿಲೋಹಿತಃ

ಎಂಬ ಶ್ರುತಿ ಸಾಕ್ಷಿಯಾಗಿ ಆತ್ಮ ಚಕ್ಷು ಚೈತನ್ಯನಾಗಿ ಮನಸಿಗೆ ಪ್ರೇರಕತ್ವವ ಮಾಡುವಾತನು ಶಿವನೇ. ಅದರಿಂದ ನೋಟಕ್ಕೂ ಮನಕ್ಕೂ ಶಿವನೇ ಕರ್ತನು. ಆ ನೋಟವನ್ನೂ ಮನವನ್ನೂ ಅಪಾತ್ರವ ಮಾಡಿದ ಕಾರಣ ಈ ದೇಹ ಪಾಶವು ಎನಗೆ ಬಂದಿತ್ತೆಂದು ಈ ನೋಟವನ್ನೂ ಮನವನ್ನೂ ಶಿವನಿಗೆ ಒಪ್ಪಿಸಿದರೆ ಚಿನ್ಮೂರ್ತಿಯಾಗುವೆನೆಂದೂ ಈ ನೋಟವನೂ ಮನವನೂ ಒಪ್ಪಿಸುವ ಸಕೀಲವೆನಗೆ ತಿಳಿಯದು. ವೀರ ಮಾಹೇಶ್ವರರಿಗೆ ತಿಳಿಯುವುದು. ಅವರ ಸೇವೆಯ ಮಾಡಿ ನೋಟವನ್ನೂ ಮನವನ್ನೂ ಶಿವನಿಗೆ ಒಪ್ಪಿಸಿ ದೇಹಭಾರವನಿಳುಹುವೆನೆಂದೂ. ವಿಷಯದಿಂದ ಬಂದ ದೇಹ ಭಾರವ ನಿರ್ವಿಷಯದಿಂದ ಇಳುಹಿ ಶಿವನೊಳಗೇಕಾರ್ಥವಾಗುವೆನೆಂದೂ. ಆರನೆಯತಿಂಗಳು ಮೊದಲಾಗಿ ಒಂಬತ್ತನೆಯತಿಂಗಳ ಪರಿಯಂತರವೂ ದಿನ ದಿನವೂ ಕೋಟಿ ಬಾಧೆಯಲ್ಲಿ ಚಿಂತಿಸುತ್ತಿಹುದು. ಆ ಮೇಲೆ ಉಕ್ಕಿನ ಕಂಬಚ್ಚಿನಲ್ಲಿ ಚಿನ್ನದ ಸಲಾಕೆಯನ್ನು ತೆಗೆವ ಹಾಗೆ ಹುಟ್ಟುವಲ್ಲಿ ಕೋಟಿ ಬಾಧೆ ಹುಟ್ಟಿದ ಹಿಂದೆ ಪ್ರಸೂತಿ ಗಾಳಿ ಸೋಂಕಿ ದಿವ್ಯಜ್ಞಾನ ಕೆಟ್ಟು ತಾ ಕೆಟ್ಟ ಕೇಡ ಮರೆದು ಸುಖ ದುಃಖಂಗಳಿಂದೆ ಸ್ತುತಿ ನಿಂದೆಗಳಿಂದೆ ಸಿರಿ ದರಿದ್ರಂಗಳಿಂದೆ ರೂಪು ಕುರೂಪುಗಳಿಂದೆ ವಿದ್ಯಾ ವಿದ್ಯಂಗಳಿಂದೆ ಹೀನಾಧಿಕದಿಂದೆ. ಕುಲಾಕುಲಂಗಳಿಂದೆ. ಜ್ಞಾನಾಜ್ಞಾನದಿಂದೆ. ಗಂಧ ದುರ್ಗಂಧಗಳಿಂದೆ. ಮುನ್ನೂರರುವತ್ತು ರೋಗಂಗಳಿಂದೆ ಪರುಷ ನೂರಕ್ಕೆ ಬರುವ ಕೋಟಿ ಬಾಧೆ ಸಾವಲ್ಲಿ ಕೋಟಿ ಬಾಧೆ ಇಪ್ಪತ್ತೆಂಟುಕೋಟಿ ನರಕವು. ಅದರಿಂದ ಈ ಗರ್ಭನರಕಕ್ಕೆ ಸರಿಯಿಲ್ಲ. ಈ ಗರ್ಭನರಕವು ಎಂದಿಗೆ ದೂರವಹುದೋ ಗುಹೇಶ್ವರಾ ?

೧೫. ಈ ದೇಹವು ದುರ್ಗುಣ ಅವಲಕ್ಷಣ ದುಃಖ ಆಶಾಬದ್ಧ ಮತ್ತು ಅಸ್ಥಿರವಾದುದು. ಈ ದೇಹಭಾರವನಿಳುಹಿ ಪೋಷಿಸುವಂಥ ತಂದೆ ಯಾರೋ ಎನಗೆ ? ಈ ದೇಹದ ದುರ್ವಿಷಯ ಹಾಲಾಹಲಕ್ಕೆ ಅಮೃತವಾಗಿ ಬಂದು ಪರಿಹರಿಸುವ ದಯಾನಿಧಿ ಯಾರೋ ಎನಗೆ ? ಈ ದೇಹದ ಪಂಚಾಗ್ನಿಯೆಂಬ ವಡಬಾನಲಕ್ಕೆ ಸಮುದ್ರವಾಗಿ ಬಂದು ಕಾಯುವರಾರೋ ಎನಗೆ ? ಈ ದೇಹದ ದುರ್ಮದವೆಂಬ ಆನೆಗಳಿಗೆ ಸಿಂಹನಾಗಿ ಬಂದು ಭಯವ ಬಿಡಿಸುವ ಕರುಣಾನಿಧಿ ಯಾರೋ ಎನಗೆ ? ಎನ್ನ ಅಜ್ಞಾನವೆಂಬ ಅಂಧಕಾರಕ್ಕೆ ಸುಜ್ಞಾನ ಜ್ಯೋತಿಯಾಗಿ ಬಂದು ಇದು ಸ್ಥೂಲದೇಹ ಸುಖ, ಇದು ಸೂಕ್ಷ್ಮ ದೇಹ ಸುಖ, ಇದು ಕಾರಣದೇಹ ಸುಖ, ಎಂದು ಕಾಣಲ್ಪಡೆ ಹೇಳುವ ಗುರುವಾರೋ ಎನಗೆ ? ಎನ್ನ ಸಂಕಲ್ಪ ವಿಕಲ್ಪವೆಂಬ ಘೋರಾರಣ್ಯಕ್ಕೆ ದಾವಾನಲನಾಗಿ ಬಂದು ಶಂಭುಪುರಕ್ಕೆ ದಾರಿಯ ತೋರಿಸುವ ಪರಮ ಗುರುವಾರೋ ಎನಗೆ ? ಎನ್ನ ಭವಾಂಬುಧಿ ಎಂಬ ಸಮುದ್ರಕ್ಕೆ ಹಡಗಾಗಿ ಬಂದು ತಡಿಯ ಸೇರಿಸುವ ದಯಾನಿಧಿಯಾರೋ ಎನಗೆ ? ಈ ನೋಟವೂ ಮನವೂ ಶಿವನೊಡವೆ. ಆದರಿಂದ ಒಡವೆಯುವನಿಗೆ ಒಡವೆಯನೊಪ್ಪಿಸಿ ದೇಹಭಾರವನಿಳುಹುವುದು. ಒಪ್ಪಿಸದಿದ್ದರೆ ದೇಹಭಾರ ಹರಿಯದು. ಗರ್ಭದಲ್ಲಿರುವಾಗ 'ಸೊಮ್ಮಿನ ಕರ್ತ'ನ ತಿಳಿವುದು. ಸೊಮ್ಮನು ಕೊಡಲಿಕ್ಕೆ ಕೂಡದು. ಗರ್ಭವ ಬಿಟ್ಟು ಬಂದರೆ ಒಡವೆ ಉಂಟು. ಕೊಡುವುದಕ್ಕೆ ಒಡವೆಯಾತನ ಕಾಣೆನು. ಒಡವೆಯಾತನ ಕಂಡರೆ ನೋಟವನು ಮನವನು ಕೊಡಬಹುದು. ನೋಟವನ್ನು ಮನವನು ನಿಲ್ಲಿಸಿದಾತನು ಶಿವನ ಪೂಜಿಸುವನು. ಆ ಶಿವಕಳೆ ದೇಹ ಭಾರವನಿಳುಹಿ ಭ್ರಮರ-ಕೀಟನ್ಯಾಯದಿಂ ನಿಲ್ಲಿಸುವದು. ನೋಟವನು ಮನವನು ನಿಲ್ಲಿಸದೆ ಪೂಜಿಸಿದರೆ ಆ ಶಿವಕಳೆ ಅವರಿಗೆ ಸಾಕ್ಷಿಯಾಗಿ ಬಂಧಮುಕ್ತಿಯನೀಯುವದಲ್ಲದೆ ದೇಹ ಭಾರವನಿಳುಹದು. ಇಂತಪ್ಪ ದೇಹ ಭಾರಕನು ಕಾಮವಿಕಾರಿ ಎಂದೂ, ಕಾಲಭೀರನು ಎಂದೂ, ಕರ್ಮದೇಹಿ ಎಂದೂ, ವಿಕಾರಿ ಎಂದೂ, ಅಶುದ್ಧನೆಂದೂ, ದುರಾಚಾರಿ ಎಂದೂ, ಚೋರನೆಂದೂ, ದುರ್ಮಾರ್ಗಿ ಎಂದೂ, ಭವಭಾರಿ ಎಂದೂ ಹೇಳಲ್ಪಟ್ಟಿತು. ಮತ್ತೆ ಹೇಗೆಂದಡೆ:– ನೋಟವನೂ ಮನವನೂ ಶಿವನಿಗೆ ಅರ್ಪಿಸಿ ಪೂಜಿಸುವಾತನೇ ಕಳಾಲಿಂಗ ಸಂಧಾನಿ ಎಂದೂ, ನಿರಾಭಾರಿ ಎಂದೂ, ನಿಕ್ಷಾಯನೆಂದೂ, ನಿರ್ಭಾವನೆಂದೂ, ನಿಷ್ಕರ್ಮನೆಂದೂ, ನಿರ್ವಿಕಾರಿ ಎಂದೂ, ನಿರ್ಮಲನೆಂದೂ, ನಿಸ್ಸಂಗನೆಂದೂ ಹೇಳಲ್ಪಟ್ಟಿತ್ತು ಗುಹೇಶ್ವರಾ.

೧೬. ಈ ಆಶಾಬದ್ಧ ದೇಹವ ಎಷ್ಟು ದಿನ ಹೊರುವೆನು ? ಹೊರಲಾರೆನಲ್ಲಾ ! ಇದನು ಪೋಷಣವ ಮಾಡಲು ದುರ್ಗುಣವ ಕೊಡುವದಲ್ಲದೆ ಸದ್ಗುಣವು ಬಾರದು. ಹಾವಿನ ಮರಿಗೆ ಹಾಲನೆರೆದ ಹಾಗೆ ಇಷ್ಟು ದಿನವೂ ಈ ದೇಹವು ಸುಖವೆಂದಿದ್ದೆನು. ವಿವರಿಸಿ ನೋಡಿದರೆ ದುಃಖ ಸ್ವರೂಪವು ಆದರಿಂದ ಈ ದುಃಖ ಶರೀರಕ್ಕೆ ಪೋಷಣವ ಮಾಡಲು ಮಹಾದೋಷವು. ಅದು ಹೇಗೆಂದಡೆ :– "ಅಪಾತ್ರ ದಾನೇ ದರಿದ್ರ ದೋಷಃ" ಎಂಬೀ ನ್ಯಾಯದಲ್ಲಿ ನೋಡಿದರೆ ಮಹಾ ದೋಷವು ಎಂದು ಪುತ್ರ, ಮಿತ್ರ, ಕಳತ್ರ, ಜಾತಿ, ಗೋತ್ರ,

ಭ್ರಾತೃ, ಪಿತೃ ಮೊದಲಾದ ಸರ್ವ ಸಂಪದವ ಬಿಟ್ಟು ಒಂದು ಮಹಾ ಅರಣ್ಯದ ದಾರಿಯಂ ಹಿಡಿದನು. ಆ ವೇಳೆಯಲ್ಲಿ ಪರಮೇಶ್ವರನು ತನ್ನ ನಿಜ ಚಿಹ್ನಂಗಳಂ ಮರಸಿಕೊಂಡು ಅನಂತಕೋಟಿ ವೇದ ಶಾಸ್ತ್ರ ಆಗಮ ಪುರಾಣ ಮಂತ್ರಾರ್ಥಸಾರ ಸುಧಾರಸವಾದ ವೀರಶೈವ ಪುಸ್ತಕವ ಹಸ್ತದಲ್ಲಿ ಪಿಡಿದು ದಿವ್ಯ ಜಂಗಮ ಲಿಂಗ ಸ್ವರೂಪನಾಗಿ ಶ್ರೀಗುರು ಕುಳ್ಳಿರಲಾಗಿ ಆ ಪುಣ್ಯಾತ್ಮಕನ ನೋಡಿ ಎಂದುದು ಹೇಗೆಂದೊಡೆ :– ಅಂಧಕನಿಗೆ ನೇತ್ರವು ಬಂದಂತೆ, ದರಿದ್ರನು ನಿಕ್ಷೇಪವ ಕಂಡಂತೆ, ರೋಗಿಯು ಸಂಜೀವನವ ಕಂಡಂತೆ, ನೋಡಿದೆನು ಆ ಶ್ರೀಗುರು ಮೂರ್ತಿಯನು ಗುಹೇಶ್ವರಾ.

೧೭. ಆ ಶ್ರೀಗುರುಮೂರ್ತಿಗೆ ಸಾಷ್ಟಾಂಗವೆರಗಿ ಶರಣು ಸಚ್ಚಿದಾನಂದ, ನಮೋ ಭಕ್ತವತ್ಸಲ, ನಮೋ ಮಹಾಪ್ರಾಣನಾಥ, ನಮೋ ಭಕ್ತದೇಹಿಕದೇವಾ, ಈ ದೇಹವೆಂಬ ಕಾರಾಗೃಹದಲ್ಲಿ ಹುಟ್ಟಿದ ಬಾಧೆಯ ಹೇಳಿಹೆನು, ದಯದಿಂದ ಕೇಳಯ್ಯಾ ಸ್ವಾಮಿ.

ಕಾಮವೆಂಬ ತಸ್ಕರನು ಹೊಕ್ಕು ನಿಜಜ್ಞಾನವೆಂಬ ರತ್ನವನಪ ಹರಿಸಿಕೊಂಡೊಯ್ದನು ದೇವಾ ! ಕ್ರೋಧವೆಂಬ ವ್ಯಾಘ್ರನು ಹೊಕ್ಕು ನಿಜಸ್ವರೂಪವೆಂಬ ಕಾಮಧೇನುವ 'ಕಡಿದು' ಕೆಡಹಿತ್ತು ದೇವಾ ! ಲೋಭ ಎಂಬ ಕಪಿ ಹೊಕ್ಕು ಶಿವ ಸತ್ಕ್ರಿಯೆ ಎಂಬ ಹಣ್ಣ ನುಂಗಿತ್ತು ದೇವಾ ! ಮೋಹವೆಂಬ ಮಳೆ ಹೊಯಿದು ಶಿವಾಚಾರವೆಂಬ ಅರಿವು ತೇಲಿ ಹೋಯಿತ್ತು ದೇವಾ ! ಮದವೆಂಬ ಆನೆ ಹೊಕ್ಕು ನಿಶ್ಚಿಂತ ನಿರ್ಮಲತ್ವವೆಂಬ ತಾವರೆಯ ಕೊಳನ ಕಲವಲವ ಮಾಡಿತ್ತು ದೇವಾ ! ಮತ್ಸರವೆಂಬ ಕೋಪಕಾಲಾನಲ ಹೊಕ್ಕು ಶಾಂತಿ ಎಂಬ ಸಮುದ್ರವು ಬತ್ತಿ ಹೋಯಿತ್ತು ದೇವಾ ! (ಮದನ)ವಿಕಾರವೆಂಬ ಚಂಡಮಾರುತ ಹೊಕ್ಕು ಸತ್ಯ, ಶೌಚ, ದಮೆ, ಶಾಂತಿ, ದಯಾ, ದಾಕ್ಷಿಣ್ಯ, ಬ್ರಹ್ಮಚರ್ಯಾದಿ ಸತ್ಕೃತ್ಯವೆಂಬ ದೀಪಗಳು 'ಮುಗ್ಗಿ ಹೋದವು ದೇವಾ ! ರಾಗ ದ್ವೇಷವೆಂಬ ಜೇನ ನೊಣವು ಕೂಡಿಕೊಂಡು, ಎನ್ನ ಜೀವಹಂಸನ ಬಾಧೆಗೊಳಿಸಲು ತಾಳಲಾಪೆನೆ ? "ಚಿದಾಕಾಶಾ ಈ ಜೀವನಿಗೆ ಉತ್ಪತ್ತಿ, ಸ್ಥಿತಿ, ಲಯಂಗಳು ಎಷ್ಟು ದಿನದಿಂದಿಹವು ? ಇನ್ನೆಷ್ಟು ದಿನಗಳಿಗೆ ಲಯವು ? ನನ್ನನು ಆರು ಈ ದೇಹಪಾಶದಲ್ಲಿ ಕಟ್ಟಿ ಮೋಹವೆಂಬ ಸಮುದ್ರದಲ್ಲಿ ಮುಳುಗಿಸಿ, ಏಳಗೊಡದೆ ಅಹಂಕಾರವೆಂಬ ಪರ್ವತವ ಎದೆಯ ಮೇಲಿರಿಸಿ ಬಾಧಿಸುವರು? ಆರು ಸ್ವಾಮಿ ? ನಾನು ಯಾರು ? ಈ ದೇಹ ಯಾರು ? ಅಲ್ಲದಿದ್ದರೆ ನಾನೆಂಬ ಚೈತನ(ನ್ಯ?)ವೇ ಈ ದೇಹವಾಗಿ ಹುಟ್ಟಿತೋ ? ಇಲ್ಲವೇ ನಾನು ಮಾಡುವ ಕರ್ಮವೇ ದೇಹವಾಯಿತೋ ? ಎಂದರೆ ದೇಹವಿಲ್ಲದೆ ಕಾಲಕರ್ಮವಿಲ್ಲ. ಹಾಗಾದರೆ ದೇಹಕ್ಕೂ ಕರ್ಮಕ್ಕೂ ಕರ್ತೃ ಒಬ್ಬನುಂಟು. ಆ ಕರ್ತನೇ ನಾನು. ದೇಹಾದಿ ಪ್ರಪಂಚ ಅಬದ್ಧವೆಂದರೆ ಕದಲಿದೊಡನೆ ಕರ್ಮದಲ್ಲಿ ಕೂಡಿತ್ತು. ಆ ಕರ್ಮದಿಂದೆ ನಾನಾ ಗರ್ಭದಲ್ಲಿ ಹುಟ್ಟಿ, ದುಃಖದಲ್ಲಿ ಹೊಂದುತ್ತಿರಲಾಗಿ ಅಬದ್ಧವೆಂಬುವುದು ಹೇಗೆ ? ಈ ರೀತಿಯಲ್ಲಿ ಸರ್ವ ದುಃಖಂಗಳಲ್ಲಿಯು ಸರ್ವ ದೇಹಂಗಳಲ್ಲಿ ಮುಳುಗು ಮಾಡಿದೆಯಾ ? ನಿಮ್ಮ ಪಾದಪದ್ಮಂಗಳೆ ಎನಗೆ ದಿಕ್ಕೆಂದು ಬಂದೆನು. ಎನ್ನ ಕಾಯ್ದು ರಕ್ಷಿಸಯ್ಯಾ ದುಃಖಸಂಹಾರಿ'

ಎಂದು ನಮಸ್ಕಾರ ಮಾಡಲು. ಆ ಶ್ರೀ ಗುರು ಸ್ವಾಮಿಯು ದಯಾದೃಷ್ಟಿಯಲ್ಲಿ ನೋಡಿ, "ನಿನ್ನ ಅಂತರಂಗದ ಸಂಕಲ್ಪ ವಿಕಲ್ಪಂಗಳ ಕೆಡಿಸಿ, ನಿನಗೆ ಮೋಕ್ಷ ರಾಜ್ಯದ ಪಟ್ಟಿವಕಟ್ಟಿ ಆಳಿಸುವೆನು. ನಿನಗೆ ಭಯಬೇಡ" ಎಂದು ಅಭಯವಿತ್ತನು ಗುಹೇಶ್ವರ ಲಿಂಗದಲ್ಲಿ.

೧೮. "ಮೊದಲು ಏನೂ ಏನೂ ಇಲ್ಲದ ಕಾಲದಲ್ಲಿ ಪರಶಿವ ಬ್ರಹ್ಮನು ಒಬ್ಬನೇ ಇದ್ದನು. ಆ ಪರಶಿವ ಲೀಲಾ ವಿನೋದದಿಂದೆ ಸರ್ವ ಜಗತ್ತು ಆಯಿತು. 'ಯಥಾ ಬೀಜಸ್ತಥಾಂಕುರಃ ಎಂಬ ನ್ಯಾಯದಲ್ಲಿ ನೋಡಿದರೆ. ಈ ಸಕಲ ಜಗತ್ತು ನೀನಲ್ಲ. ಆ ಪರಶಿವ ಬ್ರಹ್ಮನೇ ನೀನು" ಎಂದು ಆ ಶಿಷ್ಯಂಗೆ ಬೋಧಿಸಲು,

ಆ ಶಿಷ್ಯನು ಆನಂದಮಯನಾಗಿ. ಕೇಳೈ ಶ್ರೀ ಗುರುನಾಥಾ. ಒಂದು ಬಿನ್ನಪವ. ಆ ಲಿಂಗಲೀಲೆಯ ವಿಲಾಸದಿಂದೆ ದುಃಖ ಕರ್ಮ ಪಾಶ ಬಂಧದಲ್ಲಿ ಜೀವಾತ್ಮನಾಗಿ ಸರ್ವ ದುಃಖವ ಹೊಂದುತಿರಲು. ನೀವು ದಯಾನಿಧಿಯಾಗಿ ಬಂದು. ಎನ್ನೊಳಗೆ ಅಜ್ಞಾನವೆಂಬ ಅಂಧಕಾರವ ಕೆಡಿಸಲು, ಸುಜ್ಞಾನವೆಂಬ ಸೂರ್ಯ ಉದಯವಾಗಿ, ಜೀವಾತ್ಮ ಭಾವ ನಷ್ಟವಾಗಿ ಆ ಪರಶಿವ ಬ್ರಹ್ಮನೇ ನಾನೆಂದು ತಿಳಿದೆನು.

ಭೋ ಸ್ವಾಮಿ. ಇನ್ನೊಂದು ಬಿನ್ನಪ.

ಅದೇನೆಂದರೆ:– ಜಾಗರಸ್ವರೂಪವಾದ ಸ್ಥೂಲದೇಹವು ಸ್ವಪ್ನಸ್ವರೂಪವಾದ ಸೂಕ್ಷ್ಮದೇಹಕ್ಕೆ ತಿಳಿಯದು. ಸ್ವಪ್ನಸ್ವರೂಪವಾದ ಸೂಕ್ಷ್ಮದೇಹವು ಸುಷುಪ್ತಿಯ ಸ್ವರೂಪವಾದ ಕಾರಣ ದೇಹಕ್ಕೆ ತಿಳಿಯದು. ಈ ಮೂರು ದೇಹಕ್ಕೆ ಸಾಕ್ಷಿಯಾದ ಪರಶಿವ ಬ್ರಹ್ಮವೇ ತಾನಾದರೆ ತನುತ್ರಯ ವ್ಯವಹಾರ ಹೊದ್ದುವದೇ ? ಘನ ಬುದ್ಬುದ ಶೀಕರ ತರಂಗಗಳಿಲ್ಲದ ಸಮುದ್ರದ ಹಾಗೆ, ಗಾಳಿಯಿಲ್ಲದ ದೀಪದ ಹಾಗೆ, ಎಲೆಯಿಲ್ಲದ ವೃಕ್ಷದ ಹಾಗೆ ರೆಕ್ಕೆಯಿಲ್ಲದ ಪಕ್ಷಿಯ ಹಾಗೆ, ರವಿ ಚಂದ್ರ ತಾರಾ ಮೇಘಂಗಳಿಲ್ಲದ ಆಕಾಶವಿದ್ದಂತೆ, ತಾನು ನಿರ್ಮಲನಾಗಿ ನಿರಾವರಣನಾಗಿರಬೇಕಲ್ಲದೆ (ಕು ಇದೇ) ನಿರ್ವಿಕಾರ ಬ್ರಹ್ಮಲಕ್ಷಣ ಹಾಂಗಲ್ಲದೆ ತನುತ್ರಯ ವಿಕಾರ ಹೊದ್ದಿದರೆ. ಆ ಬ್ರಹ್ಮ ತಾನಾಗಬಲ್ಲನೇ ? ಕೆಲಬರು ತಾ ಬಹ್ಮನಾದರೂ ಪ್ರಾರಬ್ಧಕರ್ಮ ಬಿಡದೆಂಬರು. ಕೆಲಬರು ತಾ ಸರ್ವಸಾಕ್ಷಿಯಾಗಿ ವಿಕಾರವು ದೇಹೇಂದ್ರಿಯ ವಿಷಯಾಂತಃಕರಣಗಳಿಗಲ್ಲದೆ ಆತ್ಮಂಗಿಲ್ಲ ಎಂಬರು. ಕೆಲಬರು ಆ ಬ್ರಹ್ಮವೇ ತಾನಾದರೆಯೂ ವಿಕಾರದಲ್ಲಿ ಹೊದ್ದಲಾಗದು ಎಂದು ದೇಹವನಾಶ್ರಯಿಸಿರುವರು. ಈ ಸಂಕಲ್ಪವು ಎನಗೆ ತಿಳಿಯದು. ತಿಳುಹಿ ರಕ್ಷಿಸಯ್ಯಾ ಶ್ರೀ ಗುರುನಾಥಾ.

ಎನಲಾಗಿ ಶ್ರೀ ಗುರು ಶಿಷ್ಯನ ಪ್ರಶ್ನೆಗೆ ಮೆಚ್ಚಿ ಕೇಳು ಕುಮಾರ ನಿನಗೆ ನಿಶ್ಚಿಂತ ಕೈವಲ್ಯಸುಖವನೀವೆ ಗುಹೇಶ್ವರ ಲಿಂಗದಲ್ಲಿ.

೧೯. ಗಜಶಾಸ್ತ್ರವ ಕಲಿತ ಮಾತ್ರದಲ್ಲಿ ಗಜವನೇರಲುಬಹುದೇ ಸಾಧಕವಿಲ್ಲದೆ ? ಕರ್ಪೂರವ ಪಾತ್ರದಲ್ಲಿ (ಮಡುಗಿದರೆ) ಶಿವಾರ್ಪಣವಾಗಬಲ್ಲುದೆ ಅಗ್ನಿಯ ಮುಟ್ಟಿಸದೆ ? ಕಾಶೀಮಹಾತ್ಮ್ಯೆಯ ಕೇಳಿದಲ್ಲಿಯೇ ಸಾರೂಪ್ಯಪದವಪ್ಪುದೇ ನಡೆದು

ಹೋಗಿ ಪಂಚಕ್ರೋಶ ಮಧ್ಯದಲ್ಲಿ ತಾರಕಬ್ರಹ್ಮೋಪದೇಶದಿಂದ ಜೀವಿಸದೆ ? ಅಮೃತವೆಂದಲ್ಲಿ ತೃಪ್ತಿಯುಪ್ಪುದೇ ಭುಂಜಿಸದೆ ? ಈ ಕ್ರಮದಲ್ಲಿ ತತ್ತ್ವಮಸ್ಯಾದಿ ವಾಕ್ಯಂಗಳನ್ನು ತಿಳಿದಲ್ಲಿಯೇ ತಾನು ಬ್ರಹ್ಮವಪ್ಪನೇ, ತನುತ್ರಯವಿಕಾರ ತೋರಿದಲ್ಲಿ ಶಿವೋಹಂಭಾವವಿಲ್ಲದೆ ಭಕ್ತ ಮಾಹೇಶ್ವರರುಗಳಲ್ಲಿ ದಾಸೋಹಂಭಾವ ಇಲ್ಲದೆ ಸುಮ್ಮನೆ ವಾಗ್‌ಬ್ರಹ್ಮವ ನುಡಿವವರಿಗೆ ಕಾಮ ಕಾಲ ಕರ್ಮಂಗಳು ಬಿಡುವವೇ ಗುಹೇಶ್ವರಾ ?

೨೦. ಅಮೃತದಲ್ಲಿ ಕಹಿಯುಂಟೆ ? ದಿವ್ಯಮಣಿಯಲ್ಲಿ ಕಪ್ಪು ಉಂಟೇ ? ಜ್ಯೋತಿರ್ಮಯದಲ್ಲಿ ಅಂಧಕಾರವುಂಟೇ ? ಪಿಂಡಾದಿ ಜ್ಞಾನಶೂನ್ಯಾಂತವಾದ ನೂರೊಂದು ಸ್ಥಲವ ಕರತಳಾಮಳಕವಾಗಿ ತಿಳಿದು ಜ್ಞಾನಶೂನ್ಯದಲ್ಲಿ ತಾನು ನಿಂದು ದಿನ ದಿನ ಅಭ್ಯಾಸವಂ ಮಾಡಲು, ದೇಹಗುಣಂಗಳಿಗೆ ಯೋಚನೆ ಹುಟ್ಟಿ, ಈತನಂ ಭಂಗಬಡಿಸುವೆವೆಂದು ಬರುವವು. ಅದಕ್ಕೆ ಧೈರ್ಯಮಂ ಬಿಡದೆ ಧೀರನಾಗಿ ದೇಹಗುಣಂಗಳು ಕಾಡುವಲ್ಲಿ ಶಿವೋಹಂ ಎಂದೂ, ಶಿವಭಕ್ತರಲ್ಲಿ ದಾಸೋಹಂ ಎಂದೂ ಅರಿದು ಮರೆಯದೆ ನಡೆವ ಶಿವಶರಣರಿಗೆ ಅಜ್ಞಾನ ಉಂಟೆ ? ಇಲ್ಲವಾಗಿ. ಅದೆಂತೆಂದಡೆ:–

ಕರ್ಮ ಕರ್ತೃ ಸಾದಾಖ್ಯಂಗಳನರಿದು ಗುರು ಲಿಂಗ ಜಂಗಮಕ್ಕೆ ತನು ಮನ ಧನವ ನಿರ್ವಂಚಕತ್ವದಿಂದೀಕ್ಷಣ ಜ್ಞಾನ ಸ್ಪರ್ಶನದಿಂದೆ ಅರ್ಪಿಸಿ, ಸ್ಥೂಲ ದೇಹಾಹಂಕಾರವ ನಷ್ಟವ ಮಾಡಿ. ಮೂರ್ತಿ ಅಮೂರ್ತಿ ಸಾದಾಖ್ಯಂಗಳನರಿದು, ಇಷ್ಟ ಪ್ರಾಣ ಭಾವಂಗಳಿಗೆ ಈಕ್ಷಣ ಜ್ಞಾನ ಸ್ಪರ್ಶನದಿಂದ ಅರ್ಪಿಸಿ, ನಿಶ್ಚಲನಾಗಿ ರೂಪು ರುಚಿ ತೃಪ್ತಿ ಈ ಅರ್ಪಣಂಗಳ ಭೋಗಾಂಗ ಲಿಂಗಕ್ಕಿತ್ತು. ಸೂಕ್ಷ್ಮದೇಹದ ಚಲನ ಗುಣಂಗಳ ನಾಶ್ತಿಮಾಡಿ. ಶಿವಸಾದಾಖ್ಯ ಮಹಾಸಾದಾಖ್ಯವನರಿದು ಆ ಇಷ್ಟ ಪ್ರಾಣ ತನು ಮನ ವಾಯು ತತ್ವಂಗಳ ಯೋಗಾಂಗ ಲಿಂಗಕ್ಕೆ ತೃಪ್ತಿಯ ಮಾಡಿ, ಬದ್ಧಪಾಶ ಮುಕ್ತನಾದ ಶರಣಂಗೆ ತನುತ್ರಯ ವಿಕಾರವು ತೊಲಗುವದಲ್ಲದೆ, ತನ್ನ ತಿಳಿದ ಮಾತ್ರದಲ್ಲಿ ತಾನೇ ಬ್ರಹ್ಮವೆಂದೂ. ಮತ್ತೆ ಪ್ರಾರಬ್ಧ ಕರ್ಮ ಬಿಡದೆಂದೂ ಹೇಳುವ ತನುತ್ರಯ ಭಾರಕರ ನೋಡಿ ನಗುವ ನಮ್ಮ ಗುಹೇಶ್ವರ.

೨೧. ತನುತ್ರಯ ವಿಕಾರವ ತೊಲಗಿಸಿ ಶಿವಸ್ವರೂಪನಾಗುವದಕ್ಕೆ ಸಿದ್ಧಾಂತಮತವು ಪ್ರಶಸ್ತಕ್ಕೆ ಬಾರದು. ವೇದಾಂತಮತವು ಪ್ರಯೋಜನಕ್ಕೆ ಬಾರದು. ವೀರಶೈವದಲ್ಲಿ ತನುತ್ರಯ ವಿಕಾರವ ತೊಲಗಿಸಬಹುದು. ಅದೆಂತೆಂದೊಡೆ:–
ಮುಂದೆ ಸಿದ್ಧಾಂತ ನಿರ್ಣಯವ ಹೇಳುವೆನು.

ಅನಾದಿ ಮಲ ಸಂಸ್ಕಾರ ಮಾಯಾ ಕರ್ಮ ಗುಣಾತಿ ।
ಇಹೈವ ವಿಧಿಃ ಕಥ್ಯತೆ ಪಾಶ ಜೀವ ಸಬಂಧನಾತ್ ॥

ಎಂಬೀ ಶ್ರುತಿ ಸಾಕ್ಷಿಯಾಗಿ ಅನಾದಿಯಿಂದಲೂ ಮಲ ಮಾಯಾ ಕರ್ಮ ಉಂಟು. ಶಿವನುಂಟು. ಆ ಮಲ ಮಾಯಾ ಕರ್ಮದಿಂದ ಜೀವನಿಗೆ ಪಾಶಬಂಧತ್ವ ಉಂಟಾಗಿ

ಸುಖದುಃಖಂಗಳಂ ಬಿಡಕೂಡದು. ಶಿವಪೂಜಾ ಫಲದಿಂದ ಬಂಧಮುಕ್ತಿಯಲ್ಲದೆ ಸಹಜ ಮುಕ್ತಿ ಇಲ್ಲವೆಂದು ಹೇಳುವುದು ಸಿದ್ಧಾಂತವು ಗುಹೇಶ್ವರಾ.

### ವೀರಶೈವ ಸಿದ್ಧಾಂತ ನಿರ್ಣಯ.

೨೨. ಅನಾದಿ ನಿರ್ಮಲಶ್ಶುದ್ಧಃ ಪಾಶಜೀವ ವಿಲಕ್ಷಣಃ ।
ನಿರ್ವಿಷಯಾ ರತಿರಿತ್ಯೇತೇ ಶಿವಕರ್ಮ ಗುಣಾ ಇತಿ ॥
ನಿಜಚಿನ್ಮಯ ರೂಪಜ್ಞ ತ್ರಿವರ್ಣ ಮಲಮುದ್ಭವಂ ।
ಮಲಂ ತ್ಯಜೇತ್ ಕೃತಂಕೃತ್ಯಂಯುತಂ ಸಿದ್ಧಾಂತ ನಿರ್ಣಯಂ ॥

ಎಂಬೀ ಶ್ರುತಿ ಸಾಕ್ಷಿಯಾಗಿ. ಅನಾದಿಯಿಂದಲೂ ನಿರ್ಮಲನಾಗಿ ಶುದ್ಧನಾಗಿ ಪಾಶಜೀವಿಗಳ ಅಂಟದಾತನಾಗಿ ಶಿವರತಿ ಸುಖ ಸುಧಾಮಯನಾಗಿ ಗುರುಲಿಂಗ ಜಂಗಮದ ಸೇವೆಯಲ್ಲಿ ಗುಣವುಳ್ಳವನಾಗಿ. ನಿಜ ಚಿನ್ಮಯ ರೂಪಿನಲ್ಲಿ ಹುಟ್ಟಿದವನಾಗಿ ತ್ರಿವರ್ಣ ಮಲತ್ರಯವು. ವಿಧಿ ವಿಷ್ಣುಗಳ ಕೈಯಲ್ಲಿ ತೊಳೆಯಲು ಬಾರದಂತಾದವು ಅಂತಪ್ಪ ಮಲತ್ರಯವ ತಾ ತೊಳೆದು ಜಗದ ಜೀವರಿಗೆ (ಅವುಗಳ) ತೊಲಗಿಸುವ ಜಾಣ್ಮೆಯುಳ್ಳಾತನೇ ವೀರಶೈವ. ಇದು ವೀರಶೈವ ಸಿದ್ಧಾಂತವು ಗುಹೇಶ್ವರ ಲಿಂಗದಲ್ಲಿ.

### ಅದ್ವೈತ(ವೇದಾಂತ)ನಿರ್ಣಯ.

೨೩. ಜೀವಶ್ಶಿವಶ್ಶಿವೋಜೀವಃ ಸಜೀವಃ ಕೇವಲಃ ಶಿವಃ ।
ಪಾಶಬದ್ಧೋ ಭವೇಜ್ಜೀವಃ ಪಾಶಮುಕ್ತಸ್ಸದಾಶಿವಃ ॥

ಈ ವಾಕ್ಯ ಸಾಕ್ಷಿಯಾಗಿ ಎನ್ನುವರು ಕೆಲಬರು. ಜೀವನು ಪಾಶಬದ್ಧನು. ಶಿವನು ಪಾಶವಿಲಕ್ಷನು. ಜೀವನು ಪಶು. ಶಿವನು ಪಶುಪತಿ ಪಶುವನ್ನು ಕಟ್ಟಲು ಬಿಡಲು ಪಶುಪತಿಯಿಂದಹುದಲ್ಲದೆ. ಪಶುವು ತಾನೇ ಕಟ್ಟಿಕೊಂಡು ತಾನೇ ಬಿಟ್ಟುಕೊಂಬುವುದೇ ? ಆದರಿಂದ ಜೀವನು ಜೀವನೇ. ಶಿವನು ಶಿವನೇ. (ಇದನು ಶಿವಶರಣರೊಪ್ಪರು)

ಆದರಿಂದ ವೇದಾಂತಲಕ್ಷಣವು ಶಿವಶರಣರಿಗಲ್ಲದೆ ಇತರರಿಗೆ ಅಸಾಧ್ಯ ಗುಹೇಶ್ವರ ಲಿಂಗದಲ್ಲಿ.

### ಇನ್ನು ಶಿವಾದ್ವೈತ ನಿರ್ಣಯ.

೨೪. ಭಕ್ತಶ್ಶಿವೋ ಶಿವೋ ಭಕ್ತಃ ಸದ್ಭಕ್ತಃ ಕೇವಲಃ ಶಿವಃ ।
ಆಕಾರೇಣ ಭವೇದ್ಭಕ್ತೋ ನಿರಾಕಾರಸ್ಸದಾಶಿವಃ ॥

ಎಂಬೀ ಶ್ರುತಿ ಸಾಕ್ಷಿಯಾಗಿ. ಶಿವನು ಪಾಶವಿಲಕ್ಷಣನು. ಭಕ್ತನೂ ಪಾಶವಿಲಕ್ಷಣನು. ಶಿವನು ನಿರ್ಮಲನು. ಭಕ್ತನೂ ನಿರ್ಮಲನು. ನಿರಾಕಾರನಾದ ಶಿವನು ಜಗದ ಹಿತಾರ್ಥ ನಿಮಿತ್ತ ಆಕಾರನಾಗಿ ಭಕ್ತನಾದನು. ಅದೆಂತೆಂದೊಡೆ :–

### ಭಕ್ತ ಲಕ್ಷಣ.

ಕರ್ಮ ಕರ್ತೃ ಸಾದಾಖ್ಯದಿಂದ ಗುರುಸೇವೆ. ಲಿಂಗನಿಷ್ಠೆ. ಜಂಗಮಾರಾಧನೆಗಳಲ್ಲಿ ನಿರ್ವಂಚಕನಾಗಿ ಆವುದಾನೊಂದು ಪದಾರ್ಥವನು ಸಾಕಾರ ನಿರಾಕಾರ ವಾಯ್ವಾಕಾರ

ಸ್ವರೂಪವಾದ ಇಷ್ಟ ಪ್ರಾಣ ಭಾವಂಗಳಿಗೆ ಈಕ್ಷಣ ಜ್ಞಾನ ಸ್ಪರ್ಶನ ಅರ್ಪಣದಿಂದ ತ್ಯಾಗಾಂಗದ ವಾಯುಗುಣ ವಿಕಾರವನು ಬಯಲು ಮಾಡುವನು ಶರಣನು ಗುಹೇಶ್ವರ ಲಿಂಗದಲ್ಲಿ.

೨೫. ಮೂರ್ತಿ ಅಮೂರ್ತಿ ಸಾದಾಖ್ಯದಿಂದ ಇಷ್ಟ ಪ್ರಾಣ ಭಾವಂಗಳಲ್ಲಿ ನಿರ್ವಂಚಕನಾಗಿ ಆವುದಾನೊಂದು ಪದಾರ್ಥವನು ಸತ್ತು ಚಿತ್ತು ಆನಂದ ಸ್ವರೂಪವಾದ ಇಷ್ಟ ಪ್ರಾಣ ಭಾವಂಗಳಿಗೆ ಈಕ್ಷಣ ಜ್ಞಾನ ಸ್ಪರ್ಶನವನು ರೂಪು ರುಚಿ ತೃಪ್ತಿ ಇವುಗಳ ಅರ್ಪಣದಿಂದ ಭೋಗಾಂಗದ ಮನೋಗುಣವಿಕಾರವನು ಬಯಲು ಮಾಡುವಾತ ಶರಣನು ಗುಹೇಶ್ವರ ಲಿಂಗದಲ್ಲಿ.

೨೬. ಶಿವಸಾದಾಖ್ಯ ಮಹಾಸಾದಾಖ್ಯಗಳಿಂದ ದೇಹನೇತ್ರ, ಮನೋನೇತ್ರ, ಆತ್ಮನೇತ್ರಗಳಲ್ಲಿ ನಿರ್ವಂಚಕನಾಗಿ, ತನು ಮನ ವಾಯು ಪದಾರ್ಥಂಗಳನು ಆಹವನೀಯಾಗ್ನಿ ನೇತ್ರಾಗ್ನಿ ಪತ್ಯಾಗ್ನಿ ಸ್ವರೂಪವಾದ ಇಷ್ಟ ಪ್ರಾಣ ಭಾವಂಗಳಿಗೆ ಈಕ್ಷಣ ಜ್ಞಾನ ಸ್ಪರ್ಶದಿಂದೆ ಪಾಶಬದ್ಧವಾದ ಜನನ ಶೋಕ ಮೋಹಂಗಳ ಅರ್ಪಣದಿಂದ ಯೋಗಾಂಗದ ಅಹಂಮಮತೆ ವಿಕಾರವನು ಬಯಲು ಮಾಡುವಾತ ಶರಣನು ಗುಹೇಶ್ವರ ಲಿಂಗದಲ್ಲಿ.

೨೭. ಈ ರೀತಿಯಲ್ಲಿ ಮೂರು ದೇಹವನು ಕ್ರಿಯೆಯಿಂದೆ ಭಕ್ತಿಯಿಂದೆ ಜ್ಞಾನದಿಂದೆ ಜಾಗರದ ಭ್ರಮ, ಸ್ವಪ್ನದ ಭಾರ, ಸುಷುಪ್ತಿಯ ಅಂಧಕಾರ ಎಂಬ ಅವಸ್ಥಾತ್ರಯವನು ಇಷ್ಟ ಪ್ರಾಣ ಭಾವಂಗಳಿಗೆ ಅರ್ಪಿಸುವ ನಿರವಸ್ಥೆಯನುಳ್ಳ ಶರಣನು ಶಿವನಲ್ಲದೆ, ಅವಸ್ಥಾತ್ರಯ ಪಾಶ ಬದ್ಧನು ಶಿವನೆಂದರೆ, ನಗುವ ನಮ್ಮ ಗುಹೇಶ್ವರ ಲಿಂಗವು.

೨೮. ತನುತ್ರಯವ ಲಿಂಗತ್ರಯಕ್ಕರ್ಪಿಸಿ ಪರಮ ಲಿಂಗವಾಗುವವರನು ಆರನೂ ಕಾಣೆನು. ಮಾಯಾ ಮಲ ಕರ್ಮ ಪಾಶ ಬದ್ಧರಾಗಿ ದುರಾಚಾರ ದುಷ್ಕರ್ಮಗಳ ಬಿಡದೆ ಮಾತಿನಲ್ಲಿ ಬ್ರಹ್ಮವ ನುಡಿವವರು ಅನೇಕರುಂಟು. ಮಾತಿನಲ್ಲಿ ಬ್ರಹ್ಮವ ನುಡಿವವರು ತಮಗೆ ಚೈತನ್ಯಮೂರ್ತಿಯಾದ ಪರಶಿವನ ಕಾಣಲರಿಯರು. ಅವರಾರೆಂದೊಡೆ:–

ವಿಷ್ಣು ತಾನು ಬ್ರಹ್ಮವೆಂದು ದೇಹವಿಲ್ಲದ ಶಿರಸ್ಸಿಗೆ ಆಹಾರವ ಕೊಡಲಾರದೆ ಹೋದನು. ವಿರಿಂಚಿ ತಾನು ಬ್ರಹ್ಮವೆಂದು ಶಿರವ ಹೋಗಾಡಿಕೊಂಡನು. ಇಂದ್ರನು ತಾನು ಬ್ರಹ್ಮವೆಂದು ಭಗದೇಹಿಯಾದನು. ಮನ್ಮಥನು ತಾನು ಬ್ರಹ್ಮವೆಂದು ಭಾಳಲೋಚನನ ಅಗ್ನಿಯಿಂದೆ ಬೆಂದು ಹೋದನು. ಸನತ್ಕುಮಾರನು ತಾನು ಬ್ರಹ್ಮವೆಂದು ಒಂಟೆಯಾದನು. ಸಪ್ತರ್ಷಿಗಳು ತಾವು ಬ್ರಹ್ಮರೆಂದು ಇಂದ್ರನ ಪಲ್ಲಕ್ಕಿಯ ಹೊರುವ ಬೆಸ್ತರಾದರು. ಮನುಮಾಂಧಾತರು ತಾವು ಬ್ರಹ್ಮರೆಂದು ದಕ್ಷನ ಯಜ್ಞದಲ್ಲಿ ಸುರಾಮಾಂಸ ಭಕ್ಷಕರಾದರು. ಚಂದ್ರನು ತಾನು ಬ್ರಹ್ಮವೆಂದು ವೀರಭದ್ರನ ಅಂಗುಷ್ಠದಲ್ಲಿ ನುಗ್ಗಾದನು. ಸೂರ್ಯನು ತಾನು ಬ್ರಹ್ಮವೆಂದು ಹಲ್ಲುದುರೆ

ಬಡಿಸಿಕೊಂಡನು. ಅಗ್ನಿ ತಾನು ಬ್ರಹ್ಮವೆಂದು ನಾಲಗೆಯ ಕೊಯಿಸಿಕೊಂಡನು. ಸರಸ್ವತಿ ನಾನು ಬ್ರಹ್ಮವೆಂದು ಮೂಕೊರತೆಯಾದಳು. ಲಕ್ಷ್ಮಿ ನಾನು ಬ್ರಹ್ಮವೆಂದು ಧನಿಕರ ಮನೆಯ ದಾಸಿಯಾದಳು. ಶಾಂಭವಿಯು ನಾನು ಬ್ರಹ್ಮವೆಂದು ಶಿವನ ವಾಮಾಂಗದಲ್ಲಿ ನಿಂತಳು. ದೇವ ದಾನವರು ನಾವು ಬ್ರಹ್ಮರೆಂದು ಭವಾಂಬುಧಿಯಲ್ಲಿ ಮುಳುಗುತ್ತೇಳುತ್ತೆ ತಡಿಯ ಕಾಣರು. ಹೀನ ಮಾನವರು ತಾವು ಬ್ರಹ್ಮವೆಂದು ಜಿಹ್ವೆ ಗುಹ್ಯ ಲಂಪಟಕ್ಕೆ ಸಿಲುಕಿದವರ ನೋಡಿ ನಗುತಿರ್ದ ನಮ್ಮ ಗುಹೇಶ್ವರ ಲಿಂಗವು.

೨೯. ಸರ್ಪಾಕಾರವಾದ ಸುವರ್ಣ ತಾರಕ ಮಧ್ಯದಲ್ಲಿ ಗುಹೇಶ್ವರ ರೂಪವಾದ ಅಂಗಮಯ ಜ್ಯೋತಿಯನ್ನು ಕಮಲದಳಾಕಾರವಾದ ಹಿರಣ್ಯತಾರಕ ಕವುಚಲಾಗಿ ಆ ಅಂಗಮಯ ಜ್ಯೋತಿಯು ಒಂದು ಧವಳ ಕುಂಭ ಮಧ್ಯದಲ್ಲಿ ನೀಲವರ್ಣ ತಾರಕಯುಗಗಳ ಮಧ್ಯದಲ್ಲಿ ಎರಡು ಕುಂಭಮಯ ಹಸ್ತ ಪರಂಜ್ಯೋತಿಗಳಾಗಿ ಬೆಳಗಲಿಕೆ ಆ ಹಸ್ತಮಯ ಪರಂಜ್ಯೋತಿಗಳನ್ನು ಧವಳವರ್ಣ ತಾರಕವು ಮುಚ್ಚಿತ್ತು. ಆ ತ್ರಿಕೋಣ ಮಧ್ಯದಲ್ಲಿ ಮಾಣಿಕ್ಯವರ್ಣವಾದ ಚಿದಾಕಾಶ ತಾರಕವು, ಆ ತಾರಕಮಧ್ಯದಲ್ಲಿ ಪಂಚಮುಖದಿಂದೊಪ್ಪಿದ ಸಮರಸಮಯ ವಿಮಲ ಪರಂಜ್ಯೋತಿಯನ್ನು ಹರಿತವರ್ಣ ತಾರಕವು ಮುಚ್ಚಿತ್ತಾಗಿ ಈ ರೀತಿಯಲ್ಲಿ ಷಡುತಾರಕ ತ್ರಿಲಿಂಗ ಸಂಗ ಸಮರಸವಾದ ಶಾಂಭವಯೋಗವು ಗುಹೇಶ್ವರ ಲಿಂಗಕ್ಕಲ್ಲದೆ ಇತರರಿಗೆ ಅಸಾಧ್ಯವು.

೩೦. ಮಾನಸಪೂಜಕರು ಮಣ್ಣಾದರು. ನಿಟಿಲ ಭ್ರೂಮಧ್ಯ ಧ್ಯಾನಿಗಳು ನೀರಾದರು. ನಾದವೇ ಬ್ರಹ್ಮವೆಂಬುವವರೆಲ್ಲರೂ ವಾದಿಗಳಾದರು. ಕಣ್ಣ ಮುಚ್ಚಿ ಧ್ಯಾನ ಮಾಡುವವರು ಶಿವದ್ರೋಹಿಗಳಾದರು. ಸಿಡಿಮಿಡಿ ಮೌನಿಗಳೆಲ್ಲರೂ ಕಿಚ್ಚು ಪಾಲಾದರು. ವಾಯುಧಾರಣ ಮಾಡುವವರೆಲ್ಲ ಪ್ರಳಯಕ್ಕೊಳಗಾದರು. ಬಯಲು ಬ್ರಹ್ಮವೆಂಬುವವರೆಲ್ಲರೂ ಭ್ರಮಿತರಾದರು. ಆತ್ಮನೇ ಬ್ರಹ್ಮ ಎಂಬುವವರೆಲ್ಲ ಅಡವಿಯ ಹೊಕ್ಕರು. ಪಾಶುಪತರೆಲ್ಲ ಭವಾಂಬುಧಿಯಲ್ಲಿ ಬಿದ್ದರು. ಅನಾದಿ ಪ್ರಮಥಗಣೇಂದ್ರರಾದ ಶರಣರಿಗಲ್ಲದೆ ಷಟ್‌ತಾರಕ ತ್ರಿಲಿಂಗ ಸ್ವರೂಪವಾದ ಶಾಂಭವಮುದ್ರೆಯು ಇತರರಿಗೆ ಅಸಾಧ್ಯ ಗುಹೇಶ್ವರ ಲಿಂಗದಲ್ಲಿ.

೩೧. ಕೆಲಬರು ಇದು ಶಾಂಭವಂ, ಅದು ಶಾಂಭವಂ ಎಂಬರು ಶಾಂಭವ ಮುದ್ರೆಯ ಸಕೀಲನರಿಯದೆ. 'ಶಾಂಭವ' ಮುದ್ರೆ ಎನಲು ಶ್ರೀಗುರು ಶಿಷ್ಯ ಸಂಬಂಧ. ಶಾಂಭವಮುದ್ರೆ ಎನಲು ನಿರಾಳನಿಲಯು. ಶಾಂಭವಮುದ್ರೆ ಎನಲು ಶರಣಸತಿ ಲಿಂಗಪತಿ ನ್ಯಾಯ. ಶಾಂಭವಮುದ್ರೆ ಎನಲು ವಾಙ್ಮನಕ್ಕೆ ಅಗೋಚರ. ಶಾಂಭವಮುದ್ರೆ ಎನಲು 'ಲಿಂಗಾಂಗ' ಸಮರಸವು. ಶಾಂಭವಮುದ್ರೆ ಎನಲು ಮನು ಮುನಿ ಅಜ ಹರೀಂದ್ರ ಸುರಾಸುರರಿಗೆ ಅಸಾಧ್ಯವು. ಶಾಂಭವಮುದ್ರೆಯು ನಿಜ ಗುರು ಶಾಂತೇಶ್ವರನಿಗಲ್ಲದೆ ಇತರರಿಗೆ ಅಸಾಧ್ಯವು ಗುಹೇಶ್ವರಾ.

ಪರವಸ್ತು ಸ್ವರೂಪ ನಿರ್ಣಯ.

೩೨. ವಾಚಾತೀತಂ ಮನೋತೀತಂ ಭಾವಾತೀತಂ 'ಪರಾತ್ಪರಂ'।
ಜ್ಞಾನಾತೀತಂ ನಿರಂಜನಂ ಕಳಾ ಸೂಕ್ಷ್ಮಂಚ ಭಾವಯೇತ್ ॥
ಜ್ವಲತ್ಕಾಲಾನಲಾಭಾಸಾ ತಟಿತ್‌ಕೋಟಿ ಸಮಪ್ರಭಾ।
ತಸ್ಯೋರ್ಧ್ವಂಚ ಶಿಖಾ ಸೂಕ್ಷ್ಮಾ ಚಿದ್ರೂಪಂ ಪರಮಂಕಲಾ ॥
ನೀಲತೋಯಮಧ್ಯಸ್ಥಂ ವಿದ್ಯುಲ್ಲೇಖನ ಭಾಸ್ವತಂ।
ನೀವಾರ ಶೂಕವತ್ತನ್ವಿ ಪೀತಾಭಾಸ್ವತ್ಯಣೂಪಮಾ ॥

ಆ ಪರಶಿವ ಬ್ರಹ್ಮವು ವಾಚಕ್ಕೆ ನುಡಿಯಬಾರದಿರ್ದಂಥ, ಜ್ಞಾನಕ್ಕೆ ನಿಲುಕದಿರ್ದಂಥ, ಮನಸ್ಸಿಗೆ ನೆನೆಯಬಾರದಿರ್ದಂಥ, ಬಾವಕ್ಕೆ ಭಾವಿಸಬಾರದಿರ್ದಂಥ ನಿರಂಜನವಾಗಿ ಅತಿ ಸೂಕ್ಷ್ಮ ಕಳೆಯಾಗಿ, ಶೂನ್ಯವಾಗಿ, ಜ್ಯೋತಿಯಾಗಿ, ಕಾಲಾನಲಪ್ರಕಾಶವಾಗಿ, ಕೋಟಿ ಮಿಂಚುಗಳ ಪ್ರಭೆಗೆ ಸರಿಯಾಗಿ ದೀಪದ ತುದಿಯ ಶಿಖಿಯ ಹಾಗೆ 'ಪರಮಾಣುವಾಗಿ' ದರ್ಪಣದ ಪ್ರತಿಬಿಂಬದ ಹಾಗೆ ಅಖಿಲ ಪ್ರಕಾಶಕ್ಕೆ ನಿಲುಕಬಾರದಿರ್ದಂಥ ಸುಖದಾಯಕವಾದ ಶುದ್ಧ ಪರಮ ಕಳೆಯಾಗಿ ಕಾಣಲ್ಪಡುವದು ಶಿವಯೋಗಿಗಳಿಗೆ. ಅದು ಎಲ್ಲಿ ಎಂದರೆ:—

ನೀಲಮಣಿ ಮಧ್ಯಸ್ಥಾನದಲ್ಲಿ ಕಾರ್ಮೇಘದೊಳಗಣ ಮಿಂಚಿನ ಪ್ರಕಾಶವಾದ ಆಕಾಶ ಸ್ವರೂಪವಾಗಿ ವಾಲಾಗ್ರ ಸ್ವರೂಪವಾಗಿ ಪೀತವರ್ಣವಾಗಿ ಅತ್ಯಂತವಾದ ಅಣುರೂಪಾಗಿ ನಕ್ಷತ್ರದ ಹಾಗೆ ಸೂರ್ಯ ಚಂದ್ರಬಿಂಬ ಪ್ರಕಾಶವಾಗಿ 'ಬದನೆಯ' ಮುಳ್ಳಿನ ಹಾಗೆ ಕಾಣಲ್ಪಡುವದು ಆತ್ಮಯೋಗಿಗಳಿಗೆ.

ಲಿಂಗಧ್ಯಾನಿಗಳಿಗೆ ಗೋಮುಖ ವರ್ತುಳ ಗೋಳಕ ಸ್ವರೂಪವಾಗಿ ಕಾಣಲ್ಪಡುವದು ಗುಹೇಶ್ವರಾ.

೩೩. ಶಂಭು ಸಂಬಂಧ ಯುಕ್ತಾ ತು ಶಾಂಭವೀ ಪರಿಕೀರ್ತಿತಾ
ಆಕಾಶ ಗುಣ ಯುಕ್ತಾತು ಖೇಚರೀತ್ಯುದಿತಾ ಭವೇತ್
ಖೇಚರೀ ಶಾಂಭವೀಮುದ್ರಾ ಜ್ಞಾನಮುದ್ರಾ ಪ್ರಕೀರ್ತಿತಾ

ಖೇಚರೀ, ಶಾಂಭವೀ ಈ ಎರಡರಲ್ಲಿ ಆಕಾಶಗುಣದೊಡನೆ ಕೂಡಿದ ಖೇಚರೀ ಮುದ್ರೆಯ ಲಕ್ಷಣವ ಹೇಳಿಹೆನು:— ನಿರಾಕಾರವಾದ ಗುಣರಹಿತಾಕಾಶವನು ವಿಸ್ಫುರೋದ್ಗಾಢ ತಮೋರೂಪವಾದ ಪರಾಕಾಶವನು ಕಾಲಾನಲಪ್ರಕಾಶವಾದ ಮಹದಾಕಾಶವನು ಅಪರಿಮಿತ ದ್ಯುತಿಭರಿತವಾದ ತತ್ವಾಕಾಶವನು ರವಿಶತಕೋಟಿ ಪ್ರಕಾಶವಾದ ಸೂರ್ಯಾಕಾಶವನು ಈ ಐದಾಕಾಶವನು ನೋಡುವಾತನು ಆಕಾಶ ಸ್ವರೂಪನಾಗುವನು.

ಈ ಪಂಚಾಕಾಶವನು ಸಾಧಿಸುವ ಕ್ರಮವು ಹೇಗೆಂದಡೆ:—

ಕಾಲಾನಲಪ್ರಕಾಶವಾದ ಮಹದಾಕಾಶವೇ ಬಾಹ್ಯಲಕ್ಷ್ಯವೆಂಬ ನಾಸಾಗ್ರವು. ವಿಸ್ಫುರೋದ್ಗಾಢ ತಮೋರೂಪವಾದ ಪರಾಕಾಶವೇ ಆ ನಾಸಾಗ್ರ ಲಕ್ಷ್ಯ ದೃಷ್ಟಿ. ರವಿ

ಶತಕೋಟಿ ಪ್ರಕಾಶವಾದ ಸೂರ್ಯಾಕಾಶವೇ ಅಂತರ್ಲಕ್ಷ್ಯವೆಂಬ ಕಮಲ ನೀಲವರ್ಣಜ್ಯೋತಿ. ಅಪರಿಮಿತ ದ್ಯುತಿ ಭರಿತವಾದ ತತ್ವಾಕಾಶವೇ ಅಂತರ್ಲಕ್ಷ್ಯದಲ್ಲಿ ಮನೋಲೀಯವಾದ ಜೀವ ಪರಮರ ಐಕ್ಯವು. ನಿರಾಕಾರವಾದ ಗುಣರಹಿತ ಆಕಾಶವೇ ತ್ರಿಕೂಟ ಮಧ್ಯದಲ್ಲಿ ನಿಂದು ವಾಯುಗುಣವಿಕಾರ ಮನೋಗುಣವಿಕಾರ ನಿವೃತ್ತಿಯಾದ ತಾನು ತನ್ನರಿದು ಶಿವನನರಿಯನು ಗುಹೇಶ್ವರಾ.

೩೪. ಅಗ್ನಿ ಮಧ್ಯೇ ರವಿಸ್ಥಾನಂ ರವಿ ಮಧ್ಯೇತು ಚಂದ್ರಮಾ ।
ತನ್ಮಧ್ಯೇ ಶಾಂಕರಂ ವೃಕ್ಷಂ ಹೃದಯಂ ದಿವ್ಯ 'ಮಾನಸಂ' ॥
ಹೃದಯಾಂತರ್ಬಹಿರ್ವ್ಯಾಪ್ತಂ ಮಧ್ಯಸ್ಥಿತ ಸ್ವರೂಪಕಂ ।
ಆತ್ಮೋಹಂ ಮತಿ 'ಶ್ಚೈವ' ತಾರಕ ಬ್ರಹ್ಮ ಲಕ್ಷಣಂ ॥

ಎಂಬೀ ಶ್ರುತಿ ಸಾಕ್ಷಿಯಾಗಿ.

'ಮುಖಾದಿಂದ್ರಶ್ಚಾಗ್ನಿಶ್ಚ ಪ್ರಾಣಾದ್ವಾಯುರಜಾಯತ ।

ಎಂಬೀ ಶ್ರುತಿ ಸಾಕ್ಷಿಯಾಗಿ ಮುಖದಲ್ಲಿ ಅಗ್ನಿ ಹುಟ್ಟಿತ್ತಾಗಿ ಮುಖವೆಂದರೂ ಅಗ್ನಿ ಎಂದರೂ ಒಂದೇ.

ಚಕ್ಷೋಸ್ಸೂರ್ಯೋ ಅಜಾಯತ

ಎಂಬೀ ಸಾಕ್ಷಿಯಾಗಿ ನೇತ್ರದಲ್ಲಿ ಸೂರ್ಯ ಹುಟ್ಟಿದನಾಗಿ ನೇತ್ರವೆಂದರೂ ಸೂರ್ಯನೆಂದರೂ ಒಂದೇ.

ಚಂದ್ರಮಾ ಮನಸೋಜಾತಾ

ಎಂಬೀ ಸಾಕ್ಷಿಯಾಗಿ ಮನಸ್ಸಿನಲ್ಲಿ ಚಂದ್ರ ಹುಟ್ಟಿದನಾಗಿ ಮನವೆಂದರೂ ಚಂದ್ರನೆಂದರೂ ಒಂದೇ.

ತನ್ಮಧ್ಯೇ ಶಾಂಕರಂ ವೃಕ್ಷಂ ಹೃದಯಂ ದಿವ್ಯ ಮಾನಸಂ

ಎಂಬೀ ಶ್ರುತಿ ಸಾಕ್ಷಿಯಾಗಿ ಆ ಪ್ರಾಣಲಿಂಗ ಮಧ್ಯದಲ್ಲಿ ಮನಸ್ಸು ಪ್ರಕಾಶವಾಗಿ ಬೆಳಗುವದು.

ಮಧ್ಯಸ್ಥಿತ ಸ್ವರೂಪಕಂ

ಎಂಬೀ ಶ್ರುತಿ ಸಾಕ್ಷಿಯಾಗಿ ಆ ತ್ರಿಕೋಣ ಮಧ್ಯದಲ್ಲಿ ಆತ್ಮನಿರುವನು.

ಆತ್ಮೋಹಂ ಮತಿರಪ್ಯೇವಂ ತಾರಕಬ್ರಹ್ಮಲಕ್ಷಣಂ

ಎಂಬೀ ಶ್ರುತಿ ಸಾಕ್ಷಿಯಾಗಿ ಆ ತ್ರಿಕೋಣ ಮಧ್ಯದಲ್ಲಿ ಆತ್ಮನು ತಾನೇ ಬ್ರಹ್ಮ ಎಂದು ವಾಯುಗುಣವಿಕಾರ ಮನೋಗುಣವಿಕಾರವನಂಟದೆ ತನಗೆ ಚೈತನ್ಯವಾದ ಪರಶಿವನನರಿಯದೆ ಇದ್ದ ಕಾರಣ ಇದು ತಾರಕ ಬ್ರಹ್ಮ ಲಕ್ಷಣ (ಎನಿಸಲ್ಪಟ್ಟಿತ್ತು) ಗುಹೇಶ್ವರಾ.

# ಕಠಿಣ ಪದಕೋಶ

( ಬೆ: ಬೆಡಗಿನ ಪದ )

---

ಅ

ಅಂಕಣ : ರಿಕಾಪು

ಅಂಕೆಯಾಗು : ಅಂಕಿತದಲ್ಲಿರಿಸು. ತಾಳು

ಅಂಗಜನ ಪಡೆ (ಬೆ) : ನಾನಾವಿಧ ಕರಣಂಗಳು

ಅಂಗದ ಧರೆ (ಬೆ) : ತನುವೆಂಬ ಭೂಮಿ

ಅಂಗನೆ (ಬೆ) : ಶಾಂತಿಯೆಂಬ ಪರಾಶಕ್ತಿ

ಅಂಗವಿಲ್ಲದ ಅಂಗನೆ (ಬೆ) : ಅಕಾಯ ರೂಪಿಣಿಯಾದ ಪರಾಶಕ್ತಿ

ಅಂಗವಿಸು (ಅಂಗೈಸು) : ಒಪ್ಪಿ. ಸ್ವಾಧೀನ ಪಡಿಸಿಕೊ

ಅಂಗೈಯಮಾಲೆ (ಬೆ) : ಕರಸ್ಥಲದ ಇಷ್ಟಲಿಂಗ

ಅಂಡ (ಬೆ) : ಚಿದ್ಬ್ರಹ್ಮಾಂಡ

ಅಂಡಜ (ಬೆ) : ಚಿದ್ಬ್ರಹ್ಮಾಂಡದಲ್ಲಿ ಹುಟ್ಟಿದ ಸುಜ್ಞಾನ ಸತ್ಕ್ರಿಯೆಗಳು: ಆತ್ಮ

ಅಂಡಜವೆಂಬ ತತ್ತಿ (ಬೆ) : ಮಹಾಜ್ಞಾನ ಬಿಂದುವೆಂಬ ಚಿದ್ಬ್ರಹ್ಮಾಂಡ

ಅಂಡಲೆ : ಕಾಡಿಸು. ಪೀಡಿಸು

ಅಂಬರ (ಬೆ) : ೧. ಆತ್ಮತತ್ವ ೨. ಆತ್ಮತತ್ವದ ಮರವೆ ೩. ಆತ್ಮತತ್ವವೇ ತಾನೆಂಬ ಅಹಂಕಾರ

ಅಂಬು (ಬೆ) : ಜ್ಞಾನ

ಅಂಬುಧಿ ಉರಿಯಿತು (ಬೆ) : ಭವ ಸಮುದ್ರವು ಜ್ಞಾನಾಗ್ನಿಯಲ್ಲಿ ದಗ್ಧವಾಯಿತು

ಅಂಬಿಲ : ಹುಳಿ ಗಂಜಿ. ಅಂಬಲಿ

ಅಂತರ : ಅಂತರಿಕ್ಷ

ಅಂತು : ಅಂತ. ನಿರ್ಣಯ. ರೀತಿ. ನೆಲೆ

ಅಗ್ಗ : (ಸಂ. ಅರ್ಘ) ಶ್ರೇಷ್ಠ

ಅಗ್ಘಣಿ (ಅಗ್ಘವಣಿ. ಅಗ್ಗಣಿ) : ಕಾಲು ತೊಳೆಯಲು ಕೊಡುವ ನೀರು

ಅಗ್ನಿ (ಬೆ) : ೧. ಹೃದಯದಲ್ಲಿ ಹುದುಗಿದ ಜ್ಞಾನಾಗ್ನಿ. ೨. ಸ್ವಾನುಭಾವ ವೃಷ್ಟಿ. ೩. ತನುಗುಣಸಂಬಂಧಿಯಾದ ದೇಹ. ೪. ಆತ್ಮ

ಅಗ್ನಿಮುಖ (ಬೆ) : ಕುಂಡಲಾಗ್ನಿ

ಅಗ್ನಿಯ ಒಡಲು (ಬೆ) : ಅಗ್ನಿ ಅಂಶವಾದ ದೇಹ

ಅಗ್ನಿಯ ಕಿವಿ ಮೂಗು (ಬೆ) : ಅಗ್ನಿಯ ಅಂಶದಿಂದಾದ ದುರಭಿಮಾನ ಮತ್ತು ಅಹಂಕೃತಿ

ಅಘಹರನ ದೃಷ್ಟಿ (ಬೆ) : ಸುಜ್ಞಾನಚಕ್ಷು

ಅಚ್ಚನೆ (ಸಂ. ಅರ್ಚನೆ) : ಪೂಜೆ

ಅಚ್ಚನೆಯಾಡು : ಪೂಜಿಸು

ಅಚ್ಚಿಗ : ದುಃಖ

ಅಚ್ಚುಗ : ಆಶ್ಚರ್ಯ. ಅದ್ಭುತ. ಪ್ರೀತಿ

ಅಜ (ಬೆ) : ಮಿಥ್ಯ

ಅಜನ ಕೊಂಬು (ಬೆ) : ರಾಜಸ ಅಹಂಕಾರ

ಅಟಮಟ : ಮೋಸ. ವಂಚನೆ

ಅಟ್ಟಿಗೋಲು : ಉದ್ದಗಣೆ. ನಿಚ್ಚಣಿಕೆ.ಏಣಿ

ಅಟ್ಟಾಟಿಕೆ : ಬಿಂಕ. ಕರೆವ-ಕಳಿಸುವ ಕೆಲಸ

ಅಟ್ಟೆ : ತಲೆಯಿಲ್ಲದ ದೇಹ

ಅಟ್ಟೆಯನೂ ತಲೆಯನೂ ಬಯಲು ನುಂಗು : (ಬೆ) ಅಜ್ಞಾನ ಸುಜ್ಞಾನಗಳೆರಡನ್ನೂ ನಿವೃತ್ತಿ ಮಾಡು
ಅಟ್ಟೆಸಹಸ್ರವಾಗು (ಬೆ) : ಕರಣಂಗಳೆಲ್ಲ ಲಯವಾಗು
ಅಡಗು : ಮಾಂಸ
ಅಡಗು (ಬೆ) : ಪರಮಾನಂದ
ಅಡವಿ (ಬೆ) : ಭವಾರಣ್ಯ
ಅಡಿಗೆ (ಬೆ) : ಮನಸ್ಸನ್ನು ಪರಮಾನಂದ ರಸವಾಗುವಂತೆ ಪರಿವರ್ತಿಸುವುದು
ಅಡಿವಜ್ಜೆ : ಸಂಪ್ರದಾಯ
ಅಡು : ಅಡಿಗೆ ಮಾಡು, ಬೇಯಿಸು
ಅಡುಗಬ್ಬ : ಅಡಿಗೆ ಮಾಡಲು ಬಳಡುವ ಕಬ್ಬಿನ ಸೌದೆ, ಉರುವಲು
ಅತೀತ (ಬೆ) : ಪರಶಿವ ತತ್ವ
ಅತ್ತೆ (ಬೆ) : ಪರಾಶಕ್ತಿ, ಪ್ರಕೃತಿ
ಅದ್ದು : ಮುಳುಗು. ಮುಳುಗಿಸು
ಅದ್ವಯ : ಎರಡಳಿದ, ದ್ವಂದ್ವರಹಿತ
ಅದ್ಭುತ : (ಬೆ) ೧. ವಿದ್ಯಾಪಿಂಡ ೨. ಮಾಯೆ
ಅಧರಪಾನ (ಬೆ) : ಪಶ್ಚಿಮನಾಳವನ್ನು ಬಗೆದಗೆದು ಪಡೆವ ಅಮೃತಬಿಂದು
ಅನವು ಮಾಡು : ಅವಕಾಶ ಒದಗಿಸು
ಅನಂತವೆಂಬ ಗಿಳಿ (ಬೆ) : ಪರಮಹಂಸ
ಅನಾಮಿಕ : ಹೆಸರಿಲ್ಲದ, ಅಂತ್ಯಜ, ಅಸ್ಪೃಶ್ಯ
ಅನಲ (ಬೆ) ೧. ಜ್ಞಾನ, ಜ್ಞಾನಾಗ್ನಿ ೨. ತಾಪತ್ರಯಾಗ್ನಿ ೩. ಕುಂಡಲಾಗ್ನಿ
ಅನು : ಹದ, ಯೋಗ್ಯತೆ, ಸಿದ್ಧತೆ, ಅವಕಾಶ
ಅನುಶ್ರುತ : ಶಾಶ್ವತ
ಅನ್ನಪಾನದ ಹಿರಿಯರು (ಬೆ) : ಅನ್ನೋದಕದ ಆಧಾರದಲ್ಲಿರುವ ವ್ಯರ್ಥ ಅರಿವಿನ ಜ್ಞಾನಿಗಳು
ಅನಾದಿ (ಬೆ) : ೧. ಅಪರಕ್ಷೆ ೨. ಶರಣ ೩. ನಿಷ್ಕಲ ವಸ್ತು ೪. ಸುಚೈತನ್ಯಲಿಂಗ
ಅನಾದಿಭ್ರೂಮಧ್ಯ (ಬೆ): ಮಹಾಜ್ಞಾನದ ದೃಷ್ಟಿ
ಅನಾಹತ ಎರಡು (ಬೆ) : ದ್ವೈತಭಾವ
ಅನುಭಾವ (ಬೆ) : ಶಿವಜೀವ ಸಂಬಂಧ
ಅನುವಾಯಿತ್ತು (ಬೆ) : ಪರಬ್ರಹ್ಮನಪ್ಪ ಲಿಂಗವಾಯಿತ್ತು
ಅಪ್ಪು (ಬೆ) : ೧. ಮನ ೨. ಪ್ರಾಣ ೩. ಅಪ್ಪುವಿನ ಸೊಮ್ಮಾದ ಸಂಸಾರರಸ, ಸುಬುದ್ಧಿಯೆಂಬ ಶಿವಾನಂದ ಜಲ
ಅಪ್ಪು ಅಗ್ನಿ ಕಳೆಯಿಂದಾದ ಮೇದಿನಿ(ಬೆ): ಸೂಕ್ಷ್ಮತನು
ಅಪ್ಪುವಿನ ಬಾವಿ (ಬೆ) : ಸಂಸಾರ ವಿಷಯ ಕೂಪ
ಅಭಿಗಾ (ಘಾ)ರ : ತುಪ್ಪ
ಅಭಿನವ ಗಿಳಿ (ಬೆ) : ಜೀವನವೆಂಬ ಶುಕ
ಅಮರ (ಬೆ) : ನಿತ್ಯಪವವಿ
ಅಮಳೋಕ್ಯ : ಬಾಯಿ, ಗಂಟಲು, ವಿಶುದ್ಧ ಚಕ್ರ
ಅಮಳೋಕ್ಯವ ಮಾಡು : ನುಂಗು. ಸೇವಿಸು
ಅಮ್ಮಾವು : 'ಅದಂ' ಎಂಬ ಆಕಳು, ದುಷ್ಟಮೃಗ
ಅಮ್ಮೆನು : ಸಮರ್ಥನಾಗೆನು
ಅರಗಿನ ಕಂಭ (ಬೆ) : ಶರಣನ ಭಾವವೆಂಬ ಕಂಬ
ಅರಗಿನ ದೇಹ (ಬೆ) : ಸ್ಥೂಲತನು
ಅರಗಿನ ಪುತ್ಥಳಿ (ಬೆ) : ಮಲತ್ರಯ ಸಂಬಂಧವಾದ ದೇಹ

ಅರವತ್ತುನಾಲ್ಕು ವಿದ್ಯೆ (ಚೌಷಷ್ಟಿ ವಿದ್ಯೆ) (ಬೆ) : ಅವಿದ್ಯಾ ಗುಣಪ್ರಧಾನವುಳ್ಳ ತತ್ವಕರಣಂಗಳು
ಅರಸು (ಬೆ) : ೧. ಜೀವ ೨. ಬ್ರಹ್ಮ
ಅರಸು – ಪ್ರಧಾನ – ಮಂತ್ರಿ (ಬೆ): ಬ್ರಹ್ಮ ವಿಷ್ಣು ರುದ್ರರ ಗುಣಧರ್ಮಕರ್ಮಗಳು
ಅರಳಿಯ ಮರ (ಬೆ) : ಉಲಿವ ಶಬ್ದ
ಅರಳೆಲೆ (ಬೆ) : ಪ್ರಾರಬ್ಧ
ಅರಿ : ಕಡಿ, ಕತ್ತರಿಸು
ಅರಿದ : ಭಿನ್ನವಾದ, ಅಖಂಡವಲ್ಲದ
ಅರಿತಲೆ (ಬೆ) : ೧. ಮಿಥ್ಯಾಜ್ಞಾನ ಅಪೂರ್ಣಜ್ಞಾನ ೨. ಇಂದ್ರಿಯ ವಿಷಯ
ಅರಿದು : ಆಶ್ಚರ್ಯ, ಅಸಾಧ್ಯ, ಶ್ರೇಷ್ಠ
ಅರಿಯದ ತಲೆ (ಬೆ) : ಜ್ಞಾನೇಂದ್ರಿಯ
ಅರುವೆ (ಬೆ) : ಜ್ಞಾನ
ಅರುವೆಯನೊರಲೆಕೊಂಡಡೆ (ಬೆ) : ಸುಜ್ಞಾನದ ಖಂಡಿತಭಾವ ಹರಿಹಂಚಾಗಿ ಹೋದರೆ
ಆರ್ : ಇಂಗು, ಬಾದು, ಇಲ್ಲವಾಗು
ಅರಲುಗೊಳ್ಳು : ಬಾಯಾರು, ಬೆಂಡಾಗು, ಒಣಗು
ಅರಿಕೆ : ಜ್ಞಾನ, ತಿಳಿವಳಿಕೆ
ಅರತುಹೋಗು : ಒಣಗು
ಅರೆ : ಬಂಡೆಗಲ್ಲು
ಅರೆ (ಬೆ) : ಜಡರೂಪವಾದ ದೇಹ
ಅರೆಮರುಳ (ಬೆ) : ತಿಳಿಗೇಡಿ, ಪೆದ್ದ, ಮಂಕ
ಅರೆಮರುಳ (ಬೆ) : ಅಂತರಾತ್ಮ
ಅರ್ಕ (ಬೆ) : ಅಖಂಡ ಚಿತ್ಪ್ರಕಾಶವುಳ್ಳ ಚಿಲ್ಲಿಂಗ
ಅರ್ಕಜ : ಸೂರ್ಯನ ಮಗ ಶನಿ
ಅರ್ಕಜ (ಬೆ) : ಪ್ರಣವ ಬ್ರಹ್ಮವಾದಿ
ಅಲಗು : ಆಯುಧ, ಹರಿತಬಾಯಬಾಣ
ಅಲುಬು : ನೀರಿನಲ್ಲಿ ಎದ್ದಿ ತೊಳೆ
ಅವಗಡಿಸು : ಹತ್ತಿಕ್ಕು, ಗೆಲ್ಲು
ಅವಗ್ರಾಹಕವಾಗು : ಹಿಡಿ, ಅಂಟಿಕೊಳ್ಳು
ಅವದಿರು : ಅವರು
ಅವನಿ (ಬೆ) : ದೇಹ, ತನು
ಅವಲೋಹ : ಬಂಗಾರಕ್ಕಿಂತ ಕೀಳಾದ ಲೋಹ, ಕಬ್ಬಿಣ
ಅವಸರ : ಸಮಯ
ಅವಿದ : ಅವೇದ್ಯ ; ಜ್ಞಾನವಿಲ್ಲದ
ಅವಿರಳ ವಿಟ (ಬೆ) : ಶರಣ
ಅಸುರರು (ಬೆ) : ಕರಣಗಳು
ಅಸ್ತಮಾನ (ಬೆ) : ಮನೋಲಯ
ಅಸಗ : ಅಗಸ
ಅಸಿಯಳು : ಬಡನಡುವಿನ ಸುಂದರಿ
ಅಸ್ತಿ: ಇರುವುದು.(ನಾಸ್ತಿ:ಇಲ್ಲದಿರುವುದು)
ಅಷ್ಟಾಶೀತಿ : ಎಂಬತ್ತೆಂಟು
ಅಹ : ಆಗುವ
ಅಳವಡು : ಸಾಧ್ಯವಾಗು, ನಿಲುಕು
ಅಳವು : ಸಾಮರ್ಥ್ಯ
ಅಳಿಯ (ಬೆ) : ಶರಣ
ಅಳಿದುಕೊಡುವ ಯೋಗ (ಬೆ) : ಸುಗುಣ ಯೋಗ
ಅಳಿಯದೆ ಅಳಿದುದು (ಬೆ) : ತಾನಿದ್ದು ಪ್ರಕೃತಿಗುಣ ನಷ್ಟವಾಗಿರುವುದು
ಅಳಿಯದೆ ಕೊಡುವ ಯೋಗ (ಬೆ) : ನಿರ್ಗುಣಯೋಗ

ಆ

ಆಕಾಶ (ಬೆ) : ಆತ್ಮತತ್ವ, ಮಹಾಜ್ಞಾನ
ಆಕಾಶಗಂಗೆ (ಬೆ) : ಬ್ರಹ್ಮರಂಧ್ರದ ಅಮೃತ ರಸ
ಆಕಾಶದ ಮೃದು (ಬೆ) : ಆತ್ಮನ ಸೌಮ್ಯತೆ

ಆಕಾಶ ಬಂದು ಬೆಳೆಸಿತ್ತು ಶಿಶುವ (ಬೆ) : ಮಹತ್‌ತತ್ವದಲ್ಲಿ ನಿಜವನ್ನು ಹೊಂದಿತ್ತು
ಆಕಾಶವರ್ಣದ ಸೂಳೆ (ಬೆ) : ಅಜ್ಞಾನ ತಮೋವರ್ಣವುಳ್ಳ ಮಾಯೆ
ಆಗಡಿಗ : ಧೂರ್ತ, ನಿಂದಕ
ಆಗರ : ವಾಸಸ್ಥಾನ, ಸುಖ
ಆಗರ (ಬೆ) : ಸುಖ
ಆಗಾಗು : ಪರಿಣಾಮಹೊಂದು
ಆಗು : ಪರಿಣಾಮ, ಆಗುವಿಕೆ
ಆಗುಳಿಸು : ಆಕಳಿಸು
ಆಡಾದ ಬಂದ ಕೋಡಗ (ಬೆ) : ಸ್ವಾನುಭಾವ ವಿವೇಕದಿಂದ ಆಚರಿಸುತ್ತಿರುವ ಮನಸ್ಸು
ಆಡು : ಕುಣಿ, ಮಾಡು, ವಿಹರಿಸು, ಮೇಯಲು ಹೋಗು
ಆಡು (ಬೆ) : ಆಧಾರ ಸ್ಥಾನದಲ್ಲಿ ಉದಯವಾದ ಪ್ರಣವಜ್ಞಾನ
ಆಧಾರ : ವಿಭೂತಿಯ ಚೀಲ, ಆಶ್ರಯ, ಆಧಾರಚಕ್ರ
ಆದಿ (ಬೆ) : ೧. ನಾದ, ೨. ಮೂಲಜ್ಞಾನ, ೩. ಶಿವಲಿಂಗ, ೪. ಸಕಲ ೫. ಚಿದ್ಬಿಂದು ೬. ತನು
ಆದಿಕುಳ (ಬೆ) : ನಿಜದ ನಿಲುವು
ಆದಿಪುರ (ಬೆ) : ಚಿದ್ಬಿಂದು ಪಿಂಡ
ಆದಿ ಮಧ್ಯ ಅವಸಾನ (ಬೆ) : ಜ್ಞಾತೃ, ಜ್ಞಾನ, ಜ್ಞೇಯ
ಆದಿಯಲ್ಲಿ ಶಿದಧಾರ (ಬೆ) : ಮೂಲ ಸ್ವಾನುಭಾವವೆಂಬ ಸೂತ್ರ
ಆದಿಯ ಹೆಂಡತಿ (ಬೆ) : ಜ್ಞಾನಶಕ್ತಿ
ಆಧಾರ (ಬೆ) : ೧. ಬಿಂದು ೨. ಅತ್ಮಾಂತರ್ಗತಸ್ಥಾನ ೩. ಲಿಂಗಭಕ್ತ ೪. ಪ್ರಾಣ
ಆಧಿ : ಮನೋರೋಗ
ಆನು : ಧರಿಸು, ತಾಳು
ಆನೆ (ಬೆ) : ೧.ಅಹಂಕಾರ ೨.ಅಹಂ ಬ್ರಹ್ಮ ೩.ಅಜ್ಞಾನದಿಂದ ಕೂಡಿದ ಅಹಂಕಾರ
ಆನೆಯ ಹೆಣ (ಬೆ): ಅಹಂಕಾರ ವ್ಯಾಪಿಸಿದ ದೇಹ
ಆಪ್ಯಾಯನ : ತೃಪ್ತಿ, ಸುಖ, ಹಸಿವೆ, ಪರಿಣಾಮ
ಆಯತ : ಬಂದದ್ದು, ಅಳವಡಿಕೆ, ಸಿದ್ಧಿ
ಆಯಿತ್ತೆ : ಆದುದೆ
ಆರಡಿಗೊಳ್ : ಪೀಡಿಸು, ನೋಯಿಸು
ಆರು (ಬೆ) : ಷಡುಶಕ್ತಿಗಳು, ಷಟ್‌ಸ್ಥಲ, ಆರುವರ್ಣಗಳು, ಅರಿಷಡ್ವರ್ಗಗಳು
ಆರುತತ್ವಗಳು (ಬೆ) : ಬ್ರಹ್ಮ, ವಿಷ್ಣು, ರುದ್ರ, ಈಶ್ವರ, ಸದಾಶಿವ, ಉಪಮಾತೀತ
ಆರುದಿನ (ಬೆ) : ಷಡಂಗಯೋಗ
ಆರುಪಕ್ಕ (ಬೆ) : ಆರು ಋತುಗಳು
ಆರುಬಣ್ಣದ ಮೃ(ಬೆ): ಷಡುವರ್ಣಾತ್ಮಕ ಸ್ವರೂಪವಾದ ಮಾಯೆ
ಆರೂಕಾಣದ ಠಾವು (ಬೆ) : ಅಸಾಧ್ಯಸ್ಥಲ
ಆರೈ (ಆರಯ್) : ವಿಚಾರಿಸು, ಕಾಪಾಡು
ಆರೋಗಣೆ : ಊಟ, ಪ್ರಸಾದ ಸ್ವೀಕಾರ
ಆಲಿಕಲ್ಲು : ಮಂಜುಗಡ್ಡೆ, ಆಣೆಕಲ್ಲು
ಆಲು(ಆಲ್) : ಆರ್ಭಟಿಸು, ಚೀರು
ಆವಳಿ : ಸಾಲು, ಸಮೂಹ
ಆವು (ಹಸು) (ಬೆ) : ಜೀವ, ಲಿಂಗ
ಆಶ್ರಮ (ಬೆ) : ಸಮರಸಭಾವ
ಆಶ್ರಮಸ್ಥಾನ (ಬೆ) : ಬ್ರಹ್ಮರಂಧ್ರ
ಆಶ್ರಯ (ಬೆ) : ಜೀವಭಾವ ಹಿಂಗಿದ ಬಳಿಕ ಲಭಿಸುವ ಲಿಂಗಭಾವ
ಆಸುರ : ಉಪಟಳ, ಭೀಕರ, ಅಬ್ಬರ
ಆಹಾಂಗೆ : ಆ ಹಾಗೆ, ಆ ಮೇರೆಗೆ

ಆಹಾರ (ಬೆ) : ಶಿವಸುಖಾನಂದ
ಆಳವಾಡ : ನಿಂದಿಸು, ಹಳಿ, ಚುಚ್ಚು ಮಾತಾಡು
ಆಳಿ : ಗುಂಪು, ಸಾಲು, ಹಿಂಸೆ, ತಿರಸ್ಕಾರ
ಆಳಿಗೊಳ್ : ಹಿಂಸಿಸು, ನಿಂದಿಸು, ಚೇಷ್ಟೆಮಾಡು
ಆಳುದ್ದಿಯ : ಒಂದಾಳು ಉದ್ದದ
ಆಳ್ದ (ಬೆ) : ಜೀವ, ಶರಣ
ಆಳು (ಬೆ) : ಶಿವ
ಆಳುದ್ದಿಯದೊಂದು ಬಾವಿ (ಬೆ) : ದೇಹ

**ಇ, ಈ**

ಇಂಡೆ : ಹೂವಿನ ದಂಡೆ, ಉಂಡೆ, ರಾಶಿ
ಇಂದುರವಿಗಡಣ (ಬೆ) : ಸುಜ್ಞಾನ ಪ್ರಭೆ
ಇಂದ್ರಾಗ್ನಿಯ ಪುರಪಟ್ಟಣ (ಬೆ) : ಊರ್ಧ್ವಚಕ್ರವೆಂಬ ಇಂದ್ರಿಯಪುರ
ಇಂಬಾಗು : ಆಶ್ರಯವಾಗು
ಇಂಬು : ಆಶ್ರಯ, ಅವಕಾಶ, ವಿಸ್ತಾರ, ಸ್ಥಳ
ಇಂಬಿಡು : ಆಶ್ರಯಕೊಡು
ಇಂಬುಗೊಳ್ : ಆಶ್ರಯಪಡೆ, ಅವಕಾಶ ಪಡೆ
ಇಕ್ಕಿಡು : ಬಿಸಾಡು, ದೊಪ್ಪೆಂದು ಇಡು
ಇಕ್ಷು : ಕಬ್ಬು
ಇಡು : ಎಸೆ, ಬಲಿಕೊಡು, ಮುಡುಪಿಡು
ಇದಿರು: ಇನ್ನೊಂದು,ಬೇರೆ,ತಾನಲ್ಲದುದು
ಇಪ್ಪತ್ತೈದು(ಬೆ) :ಪಂಚವಿಂಶತಿ ತತ್ವಗಳು
ಇಪ್ಪತ್ತೈದುಗ್ರಾಮ (ಬೆ) : ಪಂಚವಿಂಶತಿ ಭೂತ ತತ್ವಗಳು
ಇಪ್ಪತ್ತೈದು ಗಿಳಿ (ಬೆ) : ಪಂಚವಿಂಶತಿ ಭೂತಾತ್ಮಕವಾದ ಜೀವಹಂಸ
ಇಪ್ಪತ್ತೈದು ತಲೆಗಳು (ಬೆ): ಪಂಚವಿಂಶತಿ ತತ್ವಗಳು
ಇಪ್ಪತ್ತೈದು ಪರಿವಾರ (ಬೆ) :ಇಪ್ಪತ್ತೈದು ತತ್ವಗಳು
ಇಬ್ಬರು ಮಕ್ಕಳು (ಬೆ) : ಜೀವ ಮತ್ತು ಪ್ರಾಣ
ಇರುಬು : ಬೇಟೆಯ ಮೃಗ ಕೆಡಹಲು ಮಾಡಿದ ತಗ್ಗು
ಇರುಬಿನ ಕುಳಿ (ಬೆ) : ಅವಿರಳಭಾವದ ಚಿತ್ರೂಪ
ಇರುಬು (ಬೆ) : ಅವಿರಳ ಭಾವ
ಇರುಳು (ಬೆ) : ಅಜ್ಞಾನ
ಇರುಳು ಹಗಲು (ಬೆ): ಅಜ್ಞಾನ ಸುಜ್ಞಾನ
ಇರುಹೆ (ಬೆ) : ಮಹಾಜ್ಞಾನ
ಇಲ್ಲವೆ : ಇಲ್ಲದಿರುವಿಕೆ, ಅಭಾವ
ಇಲ್ಲವೆ (ಬೆ) : ಮಾಯೆ
ಇಸು : ಗುರಿಯಿಟ್ಟು ಹೊಡೆ. ಬಾಣ ಬಿಡು
ಇಳಿಯಬಿಡು : ಕೈಬಿಡು
ಈಯದ ಎಮ್ಮೆಯ ಗಿಣ್ಣ (ಬೆ) : ಜ್ಞಾನೋತ್ಪತ್ತಿಯಿಲ್ಲದ ಮಾಯಾಸುಖ
ಈಯು (ನು) : ಕರುಹಾಕು, ಮರಿಹಾಕು
ಈರೇಳು ಭುವನ (ಬೆ) : ಹದಿನಾಲ್ಕು ಇಂದ್ರಿಯ
ಈ ಹಿಂಗೆ : ಹೀಗೆ, ಈ ರೀತಿ
ಈರೈದು ಕೇರಿ (ಬೆ) : ದಶನಾಳಗಳು
ಈರೈದು ತಲೆ (ಬೆ) : ದಶವಿಧ ಇಂದ್ರಿಯ ಜ್ಞಾನ
ಈಶ್ವರ (ಬೆ) : ೧. ತಮೋಗುಣದ ಪ್ರತೀಕವಾದ ಶಿವ ೨. ಈಶ್ವರ ತತ್ವಾಂಶವಾದ ಮಹಾನುಭಾವ
ಈಶಾನ್ಯದ ಒಡಲು (ಬೆ) : ಪರಮಾತ್ಮ ತತ್ವದ ನಿಲುವು

ಉ, ಊ

ಉಗಿ : ತಗೆ, ಸೆಳೆ

ಉಗುಳದು(ಬೆ): ಅನಿರ್ವಾಚ್ಯವಾಗಿದ್ದುದು

ಉಡು : ನಕ್ಷತ್ರ

ಉಡು (ಬೆ) : ಕಂಗಳ ನಾಳದ ಸೂಕ್ಷ್ಮ ತೇಜಸ್ ತತ್ವ

ಉಡುಗು : ಹಾಳಾಗು, ಗುಡಿಸು

ಉತ್ತಮಾಂಗ : ತಲೆ, ಸಹಸ್ರಾರಚಕ್ರ

ಉತ್ತರದ್ವಾರ (ಬೆ) : ಪಿಂಗಳನಾಡಿ

ಉತ್ತರಾಪಥ (ಬೆ) : ಮೋಕ್ಷಮಾರ್ಗ

ಉತ್ತರಾಪಥದ ಕೊಡಗೂಸು (ಬೆ): ಮೋಕ್ಷ ಮಾರ್ಗಕ್ಕೆ ಅನುಕೂಲವಪ್ಪ ಜ್ಞಾನಶಕ್ತಿ

ಉದಕ (ಬೆ) : ೧. ಮನಸ್ಸು, ಮನದ ನಿಲುವು ೨. ಸಂಸಾರ ವಿಷಯರಸ ೩. ಉನ್ಮನೀತತ್ವ ೪. ಪರಮಾನಂದ ಜಲ ೫. ಪ್ರಶಾಂತಭಾವ

ಉದಕದ ಕೈಕಾಲು (ಬೆ) : ಮನಸ್ಸಿನ ಸಂಕಲ್ಪ ವಿಕಲ್ಪಗಳು

ಉದಕದ ಕೊಡ (ಬೆ) : ಜ್ಞಾನಭರಿತ ಶರೀರ

ಉದಕದೊಳಗಣ ಕಿಚ್ಚು (ಬೆ) : ಮನದ ಮಧ್ಯದಲ್ಲಿಯ ಜ್ಞಾನಾಗ್ನಿ

ಉದಮದ : ಉನ್ಮದ, ಉದಿಸುತ್ತಿರುವ ಸೊಕ್ಕು

ಉನ್ಮನ : ಊರ್ಧ್ವಮುಖಿಯಾದ ಮನದ ನಿಲುವು

ಉನ್ಮಿನ : ಭ್ರೂಮಧ್ಯ ಮತ್ತು ಸಹಸ್ರಾರಗಳ ಮಧ್ಯಸ್ಥಾನ

ಉಪಚಾರ : ವ್ಯರ್ಥ ಆಚಾರ, ನೆವ

ಉಪಹತಿ : ನೋವು, ದುಃಖ

ಉಪಾಧಿಕೆ : ಹೊಂದಿಕೆ, ಅನಿವಾರ್ಯವಾದ ವಸ್ತು

ಉಭಯ ಚಂದ್ರರು (ಬೆ) : ಆದಿಶಕ್ತಿ, ಪರಾಶಕ್ತಿ

ಉರಗ (ಬೆ) : ಕುಂಡಲಿನಿ ಸರ್ಪ

ಉರವಣೆ : ಅಬ್ಬರ, ಅವಸರ, ರಭಸ

ಉರಿ (ಬೆ) : ಜ್ಞಾನಾಗ್ನಿ, ತಾಪತ್ರಯ, ಲಿಂಗಜ್ಞಾನ, ಶರಣನ ಜ್ಞಾನ, ಕುಂಡಲಾಗ್ನಿಯ ಪ್ರಭೆ, ಏಕರಸಭಾವ

ಉರಿವ ಗೊರವ (ಬೆ) : ಮಹಾಜ್ಞಾನವೆಂಬ ಮಂಟಪ

ಉರಿಯಲಿಂಗ (ಬೆ) : ಸುಜ್ಞಾನವೆಂಬ ಲಿಂಗ

ಉರಿವ ಕಿಚ್ಚು (ಬೆ) : ಮಹಾಜ್ಞಾನಾಗ್ನಿ

ಉರಿಸು : ಸಹಿಸು, ಹಿಡಿಸು

ಉಲುಹು : ಶಬ್ದ, ಸಪ್ಪಳ

ಉಲಿವ ಉಯ್ಯಾಲೆ (ಬೆ) : ಇಡಾಪಿಂಗಳಾ ಮಾರ್ಗದಲ್ಲಿ ಉಲಿದಾಡುತ್ತಿರುವ ಜೀವ ಹಂಸನ ನಿಲುವು

ಉಲಿವ ಗೆಜ್ಜೆ (ಬೆ) : ೧. ಪ್ರಕೃತಿಗುಣದಿಂದ ಮೊರೆಯುವ ಕರಣಂಗಳು ೨. ದಾಸೋಹಂ ಭಾವ

ಉಲುಹಿನ ವೃಕ್ಷ (ಬೆ) : ದೇಹ

ಉಳುಮೆ (ಉಳಿಮೆ) : ಶೇಷ, ಉಳಿದದ್ದು

ಊಡು : ಉಣಿಸು

ಊರ್ಧ್ವಮುಖದಲ್ಲಿ ಉದಮ (ಬೆ) : ನಿರ್ಗುಣಯೋಗದಲ್ಲಿ ಉದಯಿಸಿದ ಮಹಾಪ್ರಭೆ

ಊರಿಲ್ಲದ ಊರು (ಬೆ): ದೇಹಭಾವಗಳಿಂದ ನಿರ್ದೇಹ

ಊರು : ಕಚ್ಚು, ಕಡಿ, ಕುಟುಕು

ಊರು (ಬೆ): ಪಂಚಭೂತಾತ್ಮಕವಾದ ಕಾಯ, ಸರ್ವಾಂಗವೆಂಬ ಪುರ

ಎ, ಏ, ಐ

ಎಂಜಲು (ಬೆ) : ಪ್ರಾರಬ್ಧಕರ್ಮ

ಎಂಟು (ಬೆ) : ಅಷ್ಟತನು

ಎಂಟು ಆನೆ (ಬೆ) : ಅಷ್ಟಮ

ಎಂಟುದಿನ (ಬೆ) : ಆದಿಸಂಬಂಧವಾದ ಅಷ್ಟತನುಗಳು

ಎಂಟುಮುಖ (ಬೆ) : ಅಷ್ಟಮದಗಳ

ಎಂಟು ಹಿಟ್ಟು (ಬೆ) : ಅಷ್ಟಮದ

ಎಂಟು ಹೂ (ಬೆ) : ಅಷ್ಟತನುಗಳು

ಎಂಟೆರಡು (ಎರಡೆಂಟು) (ಬೆ) :ದಶವಾಯು

ಎಕ್ಕೆ : ಹೊರಸಿನ ಕಾಲುಗಳ ಮೇಲಿನ ಚೌಕಟ್ಟು

ಎಡಗೊಳ್ : ಸ್ಥಳವನ್ನು ಆಕ್ರಮಿಸು

ಎಡೆಯಾಡು : ತಿರುಗಾಡು, ಅತ್ತಿತ್ತ ಕಾಣಿಸಿಕೊಳ್ಳು

ಎಡೆದೆರಹು : ಸ್ಥಳಾವಕಾಶ, ಅಂತರ, ಭಿನ್ನಭಾವ

ಎಡೆವೊಗು : ಮಧ್ಯ ಪ್ರವೇಶಿಸು

ಎಣ್ಣೆ (ಬೆ) : ಸದ್ವಿವೇಕವೆಂಬ ತೈಲ

ಎತ್ತಳ : ಎತ್ತಣ, ಎಲ್ಲಿಯ

ಎತ್ತು (ಬೆ) :ಪಶುಭಾವದಿಂದೊಡಗೂಡಿದ ಜೀವ ; ದೇಹಸಂಬಂಧವಾದ ಜೀವ

ಎಮ್ಮೆ (ಬೆ) : ಮಾಯೆ

ಎಯ್ದಿಸು : ಕಳಿಸು, ಬರುವಂತೆ ಮಾಡು,

ಎಯ್ದು : ಹೊಂದು

ಎಯ್ದೆ : ಚೆನ್ನಾಗಿ

ಎರಡನೆಯ ಭಿತ್ತಿಯ ಚಿತ್ರ (ಬೆ) :ಸ್ವಾನುಭಾವ ವಿವೇಕ, ಪ್ರಾಣಲಿಂಗ

ಎರಡರ ಮಧ್ಯ (ಬೆ) : ಆತ್ಮದ ಅರಿವು ಮತ್ತು ದೇಹದ ಮರವೆ ಈ ಎರಡರ ಕೂಟಸ್ಥಳ

ಎರಡಿಲ್ಲದ : ಭಿನ್ನವಿಲ್ಲದ, ಅದ್ವೈತ

ಎರಡು : (ಬೆ) : ೧. ಅರಿವನ ಆಸೆ ಮತ್ತು ಅರಿಯೆನೆಂಬ ವೈರಾಗ್ಯ ೨. ಜ್ಞಾನ ಮತ್ತು ಜ್ಞೇಯ ೩. ಶಿವ, ಶಕ್ತಿ ೪. ಅರಿವು ಮತ್ತು ಮರವೆ ೫. ಅಜ್ಞಾನ ಮತ್ತು ಅಹಂಕಾರ ೬. ಲಿಂಗ ಮತ್ತು ಅಂಗ

ಎರಡು ಕೋಡು (ಬೆ) : ಅಹಂಕಾರ, ಮಮಕಾರ

ಎರಡುಬೆಟ್ಟ (ಬೆ) : ಅಹಂಕಾರ ಮಮಕಾರಗಳು

ಎರವಿನ : ಬಯಸಿದ, ಅನ್ಯೋನ್ಯವಾದ

ಎರಕ : ಪ್ರೀತಿ, ಸ್ನೇಹ

ಎರಳೆ (ಬೆ) : ೧. ಕಳಂಕ ೨. ಅಜ್ಞಾನ ಕಾಳಿಕೆ ೩. ಜೀವ ೪. ಮಹದಹಂಕಾರ

ಎಲೆ (ಬೆ) : ೧. ಪಂಚಕರ್ಮೇಂದ್ರಿಯ ೨. ಶರೀರದ ಪ್ರಪಂಚವೆಂಬ ದಳ

ಎಳಗ (ಬೆ) : ಆತ್ಮಚೈತನ್ಯ

ಎಳತಟವಾಗು : ಬಲತ್ಕಾರವಾಗಿ ಸೆಳೆಯಲ್ಪಡು, ಹಾಳಾಗು

ಎಳೆಯ ಕನ್ನಿಕೆ (ಬೆ) : ಚಿತ್‌ಶಕ್ತಿ

ಏರಿ (ಬೆ) : ದೇಹ

ಏರಿದವರು (ಬೆ) : ಸಕಲಕರಣಂಗಳು

ಏರಿಸಿಕೊಳ್ಳು : ಆರೋಪಿತಗೊಳಿಸು, ನಟಿಸು

ಏಳುಕಡಲು (ಕಡಲೇಳು) (ಬೆ) : ಸಂಸಾರ ಸಾರಾಂಬುಧಿ

ಏಳುತಾಳ (ಬೆ) : ಸುಷಮ್ನಾನಾಳದ ಸಪ್ತ ಗ್ರಂಥಿಗಳು

ಏಳು ಮೊಲೆ (ಬೆ) : ಸಪ್ತವ್ಯಸನಗಳು

ಐದರ ಠಾವು (ಬೆ) : ಆಚಾರಲಿಂಗ, ಗುರುಲಿಂಗ, ಶಿವಲಿಂಗ, ಜಂಗಮಲಿಂಗ, ಪ್ರಸಾದಲಿಂಗ ಎಂಬ ಐದು ಲಿಂಗಸ್ಥಲಗಳ ನಿಲವು

ಐದರ ಮುಸುಕನುಂಗಿ (ಬೆ) : ಮಾಯಾ ಪಟಲಗಳನ್ನು ಬೇರೆಗೊಳಿಸು
ಐದು(ಬೆ) : ೧.ಪಂಚಭೂತಗುಣಂಭ್ರಾಂತಿ ೨. ಪಂಚಭೂತಗ್ರಾಮ
ಐದು ಆನೆ (ಬೆ) : ಪಂಚಭೂತಗುಣಂಗಳ ಭ್ರಾಂತಿ
ಐದುಎಲೆ(ಬೆ):ಪಂಚಕರ್ಮೇಂದ್ರಿಯಗಳು
ಐದು ಒಂಟಿ(ಬೆ):ಪಂಚಕರ್ಮೇಂದ್ರಿಯಗಳು
ಐದು ಕಾಯಿ(ಬೆ): ಪಂಚಜ್ಞಾನೇಂದ್ರಿಯ ಗಳೆಂಬ ಫಲಗಳು
ಐದುಕುದುರೆ(ಬೆ):ಪಂಚಪ್ರಾಣವಾಯುಗಳು
ಐದು ಬಣ್ಣದ ಗಿಡ (ಬೆ) : ಪಂಚಭೂತ ಮಯವಪ್ಪ ದೇಹ
ಐದುಬಾಯ ಹುಲಿ(ಐವಾಯಹುಲಿ)(ಬೆ) : ಭೂತೇಂದ್ರಿಯಂಗಳೆ ಮುಖವಾಗಿರುವ ಕಾಲವ್ಯಾಘ್ರ
ಐದು ಬಾವಿ (ಬೆ) : ಪಂಚವಿಷಯಂಗಳು
ಐದುಮುಖದ ಅಂಗನೆ (ಬೆ): ಪಂಚಭೂತ ವೆಂಬ ಪಂಚಮುಖವುಳ್ಳ ಮಾಯೆ
ಐದು ಹೂ (ಬೆ) : ಪಂಚವಿಷಯಂಗಳೆಂಬ ಹೂ
ಐದು ಹೆಣ (ಬೆ) : ಶಬ್ದ, ರೂಪ, ಸ್ಪರ್ಶ, ರಸ, ಗಂಧವೆಂಬ ಅಚೇತನ ಸ್ವರೂಪ ವಾದ ಪಂಚವಿಷಯಂಗಳು
ಐವರಶಿರ (ಬೆ) : ಪಂಚೀಕರಣಂಗಳ ಭಿನ್ನ ಜ್ಞಾನವೆಂಬ ಶಿರಸ್ಸು
ಐವರು (ಬೆ) : ಪಂಚಭೂತಗಳು, ಪಂಚೇಂದ್ರಿಯಂಗಳು,ಪಂಚೀಕರಣಂಗಳು ಐವರು ಕೊಡಗೂಸುಗಳು
ಐವರು ಕೆಳದಿಯರು(ಬೆ):ಇಚ್ಛಾ, ಕ್ರಿಯಾ, ಮಂತ್ರ, ಜ್ಞಾನ, ಆದಿಪರಾಶಕ್ತಿಗಳು
ಐವರು ಮಕ್ಕಳು (ಬೆ) :ಪಂಚಕರಣಂಗಳು
ಐವಾಗಿಲ ಪಟ್ಟಣ (ಬೆ) : ಪಂಚೇಂದ್ರಿಯ ಯುಕ್ತ ದೇಹ
ಐವಾಯಿ : ಐದು ಬಾಯಿ

ಒ, ಓ, ಔ

ಒಂದನೊಂಬತ್ತು ಮಾಡು (ಬೆ) : ಒಂದು (ಪಶ್ಚಿಮ) ಮಾರ್ಗದಲ್ಲಿ ಯೋಗಿಸುವ ಶಿವಯೋಗವನ್ನು ಸರ್ವನಾಳದಲ್ಲಿ ಪ್ರಯೋಗಿಸಿ ಅನುಭವಿಸು
ಒಂದರ ತಲೆ (ಬೆ) : ಸುಜ್ಞಾನದ ಶಿರಸ್ಸು
ಒಂದರ ಬಸಿರು (ಬೆ) : ಅಜ್ಞಾನದ ಒಡಲು
ಒಂದು (ಬೆ) : ಜ್ಞಾನ, ಅಜ್ಞಾನ, ಸುಬುದ್ಧಿ ಪರವಸ್ತು, ಪಶ್ಚಿಮದ್ವಾರ, ಪ್ರಾರಬ್ಧ ಕರ್ಮ
ಒಂದು (ಬೆ) : ನಿರ್ದೇಹ
ಒಂದು ಒಂದೇಯಾಯಿತು (ಬೆ) : ಅಖಂಡ ಲಿಂಗವು ಮೂರ್ತಿಯಾಯಿತು
ಒಂದು ಬಾವಿ (ಬೆ) : ದೇಹ ಒಂದು ಮಠಕ್ಕೆ ಒಂಬತ್ತು ತುಂಬಿಯ
ಆಳಾಪ (ಬೆ) : ಶಿವೋऽಹಂ ಭಾವ
ಒಂದೆ ಅಗ್ಗವಣಿ (ಬೆ) : ಏಕರಸವಾದ ಪರಮಾನಂದ
ಒಂದೆ ಹೂ (ಬೆ) : ಏಕಮೇವ ಪರಬ್ರಹ್ಮ ಪರಿಪೂರ್ಣ ವಾಸನೆ
ಒಂಬತ್ತು ತೂಬು (ಬೆ) : ನವನಾಳಗಳು
ಒಂಬತ್ತು ಸಾವಿರ ಕುದುರೆ (ಬೆ) : ನವನಾಳದಲ್ಲಿ ಬಹುಮುಖವಾಗಿ ಚರಿಸುವ ಪ್ರಾಣವಾಯು ವಿಕಾರಗಳು
ಒಕ್ಕಲು : ಅಧೀನ ಅಥವಾ ಆಶ್ರಯದಲ್ಲಿರುವವ
ಒಕ್ಕುದು : ಉಂಡು ಉಳಿದುದು
ಒಗಡಿಕೆ : ಓಕರಿಕೆ
ಒಗತನ : ಬಾಳುವೆ

ಒಗೆ : ಹುಟ್ಟು, ಹೊರಹೊಮ್ಮು
ಒಟ್ಟಿ : ಸ್ವಲ್ಪ, ಒಂದಿಷ್ಟು
ಒಟ್ಟಿಲ್ (ಒಟ್ಟಿಲ) : ಗುಂಪು, ರಾಶಿ
ಒಟ್ಟೆ : ಒಂಟೆ
ಒಟ್ಟೆ ಒಂಟೆ (ಬೆ) : ಜೀವ
ಒಡಬಂದಿ : ಸೆರೆಯಲ್ಲಿದ್ದವನ ಜೊತೆಗಾರ
ಒಡಹುಟ್ಟಿದವ (ಬೆ) : ಗುರುತತ್ವ ಸಹಿತ ಉದಿಸಿದ ಶಿಷ್ಯ
ಒಡೆದ ತಳಿಗೆ (ಬೆ) : ಪ್ರಕೃತಿಗುಣ ಭಿನ್ನವಾದ ನಿಜಭಾವ
ಒಡೆಯರು (ಬೆ) : ಜ್ಞಾನಸಂಬಂಧಿಗಳು
ಒತ್ತೆಯ ಕೊಳ್ : ಶುಲ್ಕ ತೆಗೆದುಕೊಂಡು ವೇಶ್ಯ ಒಪ್ಪುವುದು
ಒನಕೆ (ಬೆ) : ೧. ಏಕೋಭಾವ ೨. ನಿರಹಂಭಾವ
ಒಪ್ಪ (ಬೆ) : ವಿಶ್ವವ್ಯಾಪಕತ್ವ
ಒಪ್ಪ : ಹೊಳಪು, ಕಾಂತಿ
ಒಪ್ಪಚ್ಚಿ : ಒಂದಿಷ್ಟು, ಅತಿಸ್ವಲ್ಪ
ಒಬ್ಬನಿಬ್ಬ ಮೂವರು (ಬೆ) : ಬ್ರಹ್ಮ ವಿಷ್ಣು ರುದ್ರರು
ಒಬ್ಬ ಶರಣ (ಬೆ) : ಸದಾಶಿವ ತತ್ವ
ಒರಲು : ನರಳು, ಹಲುಬು
ಒರಲೆ (ಬೆ) : ಹುರಿ ಹಂಚಾಗಿ ಹೋಗುವಿಕೆ
ಒರಳ (ಬೆ) : ೧. ತನು ೨. ಭಕ್ತಿಪಿಂಡದ ಅಪರ ಭಾಗ
ಒರೆ : ಪರೀಕ್ಷಿಸು, ಖಡ್ಗವಿಡುವ ಕೋಶ
ಒರೆಯಿಲ್ಲದ : ಅಸಮಾನ, ಅಸದೃಶ
ಒರೆಯಾವು : ಹೆಚ್ಚು ಹಾಲು ಕರೆವ ಆಕಳು
ಒಲವರ : ಪ್ರೀತಿ, ಮೆಚ್ಚಿಕೆ, ಪಕ್ಷಪಾತ
ಒಲೆ (ಬೆ) : ೧. ತನುತ್ರಯ ೨. ಗಣತ್ರಯ
ಒಸೆ : ಪ್ರೀತಿಸು
ಒಳಲೊಟ್ಟಿ (ಟ್ಟೆ) : ಒಳಗೆ ಪೊಳ್ಳಾದ, ತಿರುಳಿಲ್ಲದ ಮಾತು
ಒಳ್ಳೆ : ನೀರಹಾವು
ಒಳ್ಳೆ (ಬೆ) : ಭೃತ್ಯಭಾವ
ಓಗರ : ಅನ್ನ
ಓಗರ (ಬೆ) : ೧.ಸ್ವಯಂಪ್ರಕಾಶಪದಾರ್ಥ ೨. ಪರಮಾನಂದವೆಂಬ ನೈವೇದ್ಯ ೩. ತ್ರಿಪುಟಿಜ್ಞಾನ
ಓಡು : ಬೋಕಿ, ಮಣ್ಣಿನ ಪಾತ್ರೆಯ ಒಡೆದ ತುಣುಕು
ಓಲಗ : ಊಳಿಗ, ಸೇವೆ
ಓಲೆಕಳೆ : ಪ್ರಾರಬ್ಧ ಲಿಪಿಯನ್ನು ನಿವೃತ್ತಿಗೊಳಿಸು
ಓವರಿ : ರಹಸ್ಯದ ಕೋಣೆ, ಒಳಕೋಣೆ
ಓಸರಿಸು : ಹಿಂದೆಗೆ, ಓರೆಮಾಡು

**ಕ, ಖ**

ಕಂಕಣ (ಬೆ) : ೧. ಸಂಸಾರವೆಂಬ ಜಲ ಬಿಂದು ೨. ದೃಢನಿಷ್ಠೆ
ಕಂಗಳ ಕರುಳು (ಬೆ) : ಇದಿರಿಟ್ಟು ತೋರುವ ಭಿನ್ನರೂಪ ವಿಷಯ
ಕಂಗಳು (ಬೆ) : ಸುಜ್ಞಾನದೃಷ್ಟಿ, ಇಷ್ಟಲಿಂಗ
ಕಂದ (ಬೆ) : ೧. ಸುವಿವೇಕವೆಂಬ ಶಿಷ್ಯ ೨. ಜೀವೋಽಹಂ ಭ್ರಾಂತಿ ೩. ಶಿವ ತತ್ವ ೪. ಮನಸ್ಸು
ಕಂದಲು (ಬೆ) : ೧. ದೇಹಭಾವ ೨. ದೇಹ
ಕಂಬಳಿ (ಬೆ) : ಮಹಾಜ್ಞಾನ
ಕುಂಭ (ಬೆ) : ೧. ದೃಢ ಬುದ್ಧಿ ೨. ಏಕೋಭಾವ ೩.ಸ್ವಯಂಭುಲಿಂಗ
ಕಕ್ಷ, ಕಕ್ಷೆ : ಕುಂಕಳ, ಬಗಲು
ಕಕ್ಷಕುಳ : ಜಂಗಮನ ಬಗಲಚೀಲ, ಜೋಳಿಗೆ
ಕಟ್ಟಿದುದು (ಬೆ) : ಪರಬ್ರಹ್ಮ
ಕಟ್ಟುಗ್ರದ ಇರುಹೆ (ಬೆ) : ೧. ಮಹಾ ಜ್ಞಾನ. ೨. ಜೀವ
ಕಟ್ಟೆ (ಬೆ) : ಮನಸ್ಸು

ಕಟ್ಟೋಗರ : ಕಟ್ಟಿದ ಅನ್ನ, ಬುತ್ತಿ
ಕಡವಸ : ಜಿಂಕೆ, ಹುಲಿ, ಸಿಂಹಗಳ ಚರ್ಮದಿಂದ ಮಾಡಿದ ಆಸನ
ಕಡವಸ (ಬೆ) : ಮಿಥ್ಯಾಚರ್ಮ, ಮಿಥ್ಯೆ
ಕಡವಸದ ಸ್ವಾಮಿ (ಬೆ) : ಜೀವನವೆಂಬ ಮಿಥ್ಯಾಚರ್ಮದೇಹಿ
ಕಡುಗಲಿ ವಿದ್ಯೆ (ಬೆ) : ಸದ್ವಿದ್ಯೆಯೆಂಬ ಸುಖ
ಕಡುಜಲ : ವೇಗವಾಗಿ ಹರಿವ ನರಿಯ ನೀರು
ಕಡೆಯ ಹೊಲ (ಬೆ) : ಮೀರಿದ ಸ್ಥಲ
ಕಡೆಯಾಣಿ : ಚೊಕ್ಕಚಿನ್ನ
ಕಣ್ಣಡ (ಕ), (ಬೆ) : ಸಂಸಾರ
ಕಣ್ಣಡ (ಕನ್ನಡ, ಕನ್ನಡಕ ): ಮರೆ, ಪರದೆ
ಕಣ್ಣಾಲಿ ಕಪ್ಪನುಂಗು (ಬೆ) : ಅಜ್ಞಾನವೆಂಬ ಕಾಳಿಕೆಯನ್ನು ಅಳಿ
ಕಣ್ಣಿಲ್ಲದಾತ (ಬೆ) :೧.ಬಿನ್ನದೃಷ್ಟಿಯಳಿದ ಶಿವಜ್ಞಾನಿ ೨. ಪೂರ್ಣದೃಷ್ಟಿ ಪಡೆದವ
ಕಣ್ಣು (ಬೆ) : ೧. ಶಿವಜ್ಞಾನದೃಷ್ಟಿ ೨. ಅಜ್ಞಾನದೃಷ್ಟಿ ೩. ಭಿನ್ನದೃಷ್ಟಿ
ಕತ್ತರಿವಾಣಿ (ಬೆ) : ಸೋಂಕಿದವರನ್ನು ಕಡಿದು ಕತ್ತರಿಸುವ ಅತಿವಿಷೋದಕ ದಂತಿರುವ ಸಂಸಾರರಸ
ಕತ್ತಲೇ (ಬೆ) : ಅಜ್ಞಾನ, ಮಿಥ್ಯಜ್ಞಾನ, ತಾಮಸ, ಅವಿದ್ಯೆ, ಮಾಯೆ
ಕದಳಿ (ಬೆ) : ಕಾಯವಿಕಾರ
ಕದಳಿಯ ಬನ (ಬೆ) : ಕಾಯ, ದೇಹ
ಕದಳಿವರಿ : ಕದಳಿಬನ ದಾಟು, ಕದಳಿಯ ಫಲದಂತೆ ಸುಲಭವಾಗಿ ನುಂಗು
ಕಂದ : ಗಡ್ಡೆ, ಮಗು
ಕಂದಲ (ಲು) : ಮಣ್ಣಿನಿಂದ ಮಾಡಿದ ಪಾತ್ರೆ
ಕಂದಿ : ಕರುಹಾಕಿದ ಹಸು
ಕಂದು : ಎಳೆಯಕರು, ಕಲಂಕ, ಬಾಡು
ಕಂದೆರವಿ : ಕಣ್ಣು ತೆರೆಯುವಿಕೆ
ಕಂದೆರೆ : ಕಣ್ಣುತೆರೆ, ಅರಳು
ಕಂದೊಳಲುಗೊಳ್ : ತಪ್ಪಾಗಿ ಕಾಣು
ಕನ್ನಗಳ್ಳ (ಬೆ) : ಲಿಂಗದ ಮೇಲೆ ನಂಬಿಕೆಯಿಲ್ಲದ
ಕನ್ನಡಿ (ಬೆ) : ತನ್ನತಾನದಿರಿಟ್ಟು ನೋಡಿ ಕಂಡು ತನ್ನನರಿಯುವ ಸದ್ವಿವೇಕ
ಕಪಿಜ (ಬೆ) : ಮನಸ್ಸಿನ ಜನ್ಮಸ್ಥಾನವಾದ ಕಪ್ಪಡ : ಬಟ್ಟೆ
ಕಪ್ಪರ (ಸಂ. ಖರ್ಪರ) : ಭಿಕ್ಷಾಪಾತ್ರೆ
ಕಪ್ಪು (ಬೆ) : ಮಾಯಾತಮಂಧ, ಅಜ್ಞಾನ ಕಾಳಿಕೆ
ಕಪ್ಪೆ (ಬೆ) : ಬ್ರಹ್ಮರಂಧ್ರದೊಳಗಣ ಪರಮ ಶಾಂತಿಯೆಂಬ ಬಿಂದು
ಕಬ್ಬಿಲ : ಮೀನುಗಾರ, ಬೆಸ್ತ
ಕಬ್ಬಿಸಿಲು : ಪ್ರಖರ ಬಿಸಿಲು, ನೆರಳು ?
ಕಬ್ಬುನ (ಬೆ) : ದೇಹ
ಕಮಲಜ (ಬೆ) : ಸಾತ್ವಿಕಗುಣದ ಪ್ರತೀಕವಾದ ಬ್ರಹ್ಮ
ಕರ (ಬೆ) : ಸದ್ಭಾವ ಹಸ್ತ, ಸುಜ್ಞಾನಹಸ್ತ, ಮಹಾಪ್ರಕಾಶ
ಕರಡಗೆ, ಕರಡಿಗೆ : ಬುಟ್ಟಿ, ಪೆಟ್ಟಿಗೆ
ಕರಡಿ (ಬೆ) : ಮಾಯೆ
ಕರವಾಳ : ಖಡ್ಗ, ಕತ್ತಿ
ಕರಸ್ಥಲ (ಬೆ) : ಇಷ್ಟಲಿಂಗ
ಕರಿ (ಬೆ) : ನಾನು ಎಂಬ ಅಹಂಕಾರ, ಅಜ್ಞಾನ
ಕರಿತಲೆಯ ಅರಮನೆ (ಬೆ) :ಬ್ರಹ್ಮಾಹಂಕಾರಕ್ಕೆ ನೆಲಮನೆಯಾದ ಬ್ರಹ್ಮರಂಧ್ರ
ಕರಿಯ ಕಬ್ಬಿಲ: (ಬೆ) : ಕಾಮನೆಂಬ ಜಾತಿಗಾರ
ಕರಿಯ ಕೋಗಿಲೆ (ಬೆ) : ಕ್ರಿಯಾಶಕ್ತಿ, ಪ್ರಣವ
ಕರಿಗೊಳ್: ಹೆಪ್ಪುಗಟ್ಟು,ಮೂರ್ತಿಗೊಳ್ಳು

ಕರಿಯ ಘಟ (ಬೆ) : ಅಜ್ಞಾನದ ಕತ್ತಲೆ ಮುಸುಕಿರುವ ಚಿತ್ತ

ಕರಿಯ ತಲೆ (ಬೆ) : ಕರ್ಮೇಂದ್ರಿಯ

ಕರಿಯ ಮುತ್ತು (ಬೆ) : ಅಜ್ಞಾನ ಸಂಬಂಧದ ಮುಕ್ತಿ

ಕರಿಯಬಣ್ಣದ ಮುಸುಕು (ಬೆ) : ಅಜ್ಞಾನ

ಕರು (ಬೆ) : ಕುಂಡಲಾಗ್ನಿಯ ಭಿನ್ನತೃಪ್ತಿ, ಶರಣ

ಕರು: ಎಕರ

ಕರುಳು : ಪ್ರೀತಿ, ಚಾಂಚಲ್ಯ

ಕರುಳಿಲ್ಲದಾತ (ಬೆ) :ನಿರ್ದೇಹಿಯಾಗಿರುವ ಅಂತರಾತ್ಮ

ಕರುಳು (ಬೆ) : ಕರಣಾದಿಗಳು, ಕರಣಾದಿ ಗುಣಂಗಳು

ಕರ್ಪೂರ (ಬೆ) : ಸ್ವಾನುಭಾವ

ಕಲಿ (ಬೆ) : ದೃಢಬುದ್ಧಿಯ ಶರಣ

ಕಲ್ಪಿತದ ಉದಯ (ಬೆ) : ಕಲ್ಪಿತಭಾವದಿಂದ ಉದಿಸಿದ ಮನ

ಕಲ್ಲಬೀಜ (ಬೆ) : ಮೂಲಾಹಂಕಾರ

ಕಲ್ಲಹೋರು (ಬೆ) : ಹೃದಯವಿವೇಕವೆಂಬ ನಾಳ

ಕಲ್ಲು (ಬೆ) : ೧. ಕಲ್ಲಿನಂತೆ ಬಿರುಸಾಗಿರುವ ಹೃದಯ ೨. ಜಡವಾದ ಕಾಯ

ಕಲ್ಪಿತವಾಗು : ಗುರಿಯಾಗು

ಕವುಚು (ಕವಚು, ಕೌಚು): ಬೆವರಿನ ದುರ್ವಾಸನೆ

ಕಸ್ತೂರಿಯ ಮೃಗ (ಬೆ) : ಸ್ವಾನುಭಾವ ಯುಕ್ತ, ಲಿಂಗಸ್ವಾದನೆ

ಕಳಸ (ಬೆ) : ಸುಜ್ಞಾನ

ಕಳಿ : ದಾಟು, ಪಾರಾಗು, ಬಿಚ್ಚಿಡು

ಕಳೆ : ನಿವಾರಿಸು, ಬಿಚ್ಚಿಡು, ತೇಜ, ಹೊಳಪು

ಕಳ್ಳ (ಬೆ) : ಕರ್ಮ

ಕಳ್ಳರು (ಬೆ) : ಪರಮಾರ್ಥ ವಂಚಕರೆಂಬ ಕರಣಂಗಳು

ಕಾಡುಕೋಣ (ಬೆ) : ಭವಾರಣ್ಯದಲ್ಲಿರುವ ಜೀವಪಶು

ಕಾಕು : ಕೆಟ್ಟ

ಕಾಡು : ಸುಡುಗಾಡು, ರುದ್ರಭೂಮಿ

ಕಾಣಬಾರದ ನೆಳಲು (ಬೆ) : ಚಿತ್‌ಛಾಯೆ

ಕಾರಮೇಘ (ಬೆ) : ಅಭ್ರಚ್ಛಾಯಾ ಮಾತ್ರವಾದ ತನು

ಕಾರಮೇಘದ ಬೆಳಸು (ಬೆ) : ತನುವಿನ ಧರ್ಮ ಕರ್ಮಂಗಳು

ಕಾರೆಯ ಮುಳ್ಳು (ಬೆ) : ವಿಷಯಾದಿ ಕಂಟಕ

ಕಾಲು (ಬೆ) : ೧. ಸದಾಚಾರ ಸಚ್ಚರಿತೆ ೨. ಎಡೆಯಾಟ

ಕಾಲುಗಾಹು : ಅಂಗರಕ್ಷಕ, ಪಾದಸೇವಕ

ಕಾಲುವಳ್ಳಿ : ಚಿಕ್ಕಹಳ್ಳಿ

ಕಾಸಲಿಲ್ಲದ ತುಪ್ಪ (ಬೆ) : ಶರಣನ ಸ್ವಯಂಭುಜ್ಞಾನ

ಕಾಳರಕ್ಕಸಿ (ಬೆ) : ತಾಮಸರೂಪದ ಮಾಯೆ

ಕಾಳಿ (ಬೆ) : ಸಂಹಾರರೂಪಿಣಿಯಾದ ಶಕ್ತಿ

ಕಾಳುಗುರಿಕೆ : ಒಂದೇ ಸವನೆ ಗುರಿಕೆ ಹೊಡೆಯುವಿಕೆ

ಕಿಂಕಿಲ : ವಿನೀತ, ನಮ್ರ

ಕಿಚ್ಚು (ಬೆ) : ಅಹಂಕಾರವೆಂಬ ಕಿಚ್ಚು, ಮೂಲಾಗ್ನಿ, ಜ್ಞಾನಾಗ್ನಿಯಿಂದ ಪ್ರಕಾಶಿಸುವ ಶ್ರೇಷ್ಠವಾದ ಅವಸ್ಥೆ

ಕೀಲ : ಕೀಲು, ರಹಸ್ಯ

ಕೀಲು(ಲ) (ಬೆ) : ಪ್ರಾಣವಾಯು

ಕುಂಜರ : ಆನೆ

ಕುಂಜರ (ಬೆ) : ಅಹಂಕಾರ

ಕುಂಡಲಿ (ಬೆ) : ಮೂಲಸ್ಥಾನ
ಕುಂಭಿನಿಯುದರ (ಬೆ) : ಅಹಂಕಾರವೆಂಬ ಗೋಡೆ
ಕುಡಿತೆ : ಅರ್ಧಬೊಗಸೆ, ಗುದುಕು
ಕುಣಿಕೆ : ಕುಣಿ, ತಗ್ಗು
ಕುಂಡಲಿಗನ ಕೀಟ : ಕಡಜೇರಿಗೆ ತರುವ ಹುಳ
ಕುತಾಪಿ : ನೀಚ ಹಂಬಲವುಳ್ಳವ
ಕುತ್ತು : ಇಡು, ಊರು, ನೆಡು
ಕುಂಭಿನಿ : ಭೂಮಿ
ಕುರಿ : ಉದ್ದೇಶಿಸು, ಆಲೋಚಿಸು
ಕುರಿ (ಬೆ) : ಇಂದ್ರಿಯ
ಕುರಿಯ ಹಾಲು (ಬೆ) : ಇಂದ್ರಿಯ ಸುಖರಸ
ಕುರುಡ (ಬೆ) : ಭಿನ್ನದೃಷ್ಟಿಯಿಲ್ಲದ ಶರಣ
ಕುರುಬ (ಬೆ) : ಮನಸ್ಸು
ಕುಲದಲಧಿಕ (ಬೆ) : ಸತ್ಕುಲಜನಾದ ಶಿವ
ಕುಳ : ರೀತಿ, ಮೂಲ, ರಹಸ್ಯ
ಕುಳಸ್ಥಳ : ಆದ್ಯಂತ ವಿವರ, ತುದಿ ಮೊದಲು
ಕುಳ್ಳಿರ್ದ ಶಿಶು (ಬೆ) : ಚಿರಚಿತ್ತದ ಶಿಷ್ಯನೆಂಬ ಶಿಶು
ಕೂಕಂಬಿಕಾರ : ನಾವೆ ನಡಸುವವ
ಕೂರಹು : ಹರಿತವಾದ ಖಡ್ಗ
ಕೂಸು (ಬೆ) : ೧. ಸ್ವಾನುಭವ ೨. ಶರಣ ೩. ತನ್ನಲ್ಲಿ ಹುಟ್ಟಿದ ನಿಜದ ನಿಲವು
ಕೂಸು ಸತ್ತಿತ್ತು (ಬೆ) : ಶರಣನು ಲಿಂಗ ಲೀಯವಾದನು
ಕೆಂಗರಿಯ ಬಾಣ (ಬೆ) : ಸುಜ್ಞಾನ ಬಾಣ
ಕೆಂಡದಂಡೆ (ಬೆ) : ಸುಜ್ಞಾನಾಗ್ನಿ
ಕೆಂದಾವರೆ (ಬೆ) : ಹೃದಯ ಕಮಲ
ಕೆಂಪು (ಬೆ) : ರಾಜಸ ಗುಣ
ಕೆಚ್ಚಲು (ಬೆ) : ವಿಷಯರಸ ತುಂಬಿದ ಸ್ಥಾನ
ಕೆಡೆ : ಬೀಳು
ಕೆಮ್ಮನೆ : ಸುಮ್ಮನೆ, ವೃಥಾ
ಕೆರೆ (ಬೆ) : ವಿಷಯರಸ ತುಂಬಿದ ಸಂಸಾರ ಕೂಪ
ಕೆಸರುಗಲ್ಲು (ಬೆ) : ಜ್ಞಾನ ವಿಶ್ರಾಂತಿ
ಕೆಸರುಗಲ್ಲು : ಅಡಿಗಲ್ಲು
ಕೆಳದಿಯರೈವರು (ಬೆ)ಇಚ್ಛಾ–ಕ್ರಿಯಾ–ಮಂತ್ರ(ಜ್ಞಾನ)–ಆದಿ–ಪರಾಶಕ್ತಿಗಳು
ಕೇರಿ ಕೇರಿ (ಬೆ) : ಅಂತರಂಗದ ಕರಣ ಬೀದಿಗಳು
ಕೇಸರಿ (ಬೆ) : ಸುಜ್ಞಾನ
ಕೈ (ಬೆ) : ೧. ಸಂಕಲ್ಪ ಹಸ್ತ ೨. ಜ್ಞಾನವೆಂಬ ಹಸ್ತ ೩. ಅಭಿನ್ನಹಸ್ತ ೪. ಭಿನ್ನಹಸ್ತ ೫. ಸದ್ಭಾವಹಸ್ತ
ಕೈಕಾಲು (ಬೆ) : ಸಂಕಲ್ಪ, ವಿಕಲ್ಪ
ಕೈಚೆಸಲಾಗು (ಬೆ) : ಕೈಗೆ ಇಷ್ಟಲಿಂಗ ಪ್ರಾಪ್ತವಾಗು
ಕೈಮೂಡು (ಬೆ) : ದೃಢನಿಶ್ಚಯವೆಂಬ ಹಸ್ತ ಹುಟ್ಟು
ಕೈಯ ದರ್ಪಣ (ಬೆ) : ಪರಬ್ರಹ್ಮ, ಅಂಗೈಲಿಂಗ
ಕೈಯಿಲ್ಲದ ವ್ಯಾಧ (ಬೆ) : ಭಿನ್ನಹಸ್ತವಳಿದು ಅಭಿನ್ನಹಸ್ತ ಪಡೆದ ಶರಣ
ಕೈಯಿಲ್ಲದಾತ (ಬೆ):ಅಭಿನ್ನಭಾವವುಳ್ಳವನು
ಕೈಸಾರು : ಕೈಗೆ ಬರು, ಸಾಧ್ಯವಾಗು,
ಕೊಂಕಣದ್ವೀಪ (ಬೆ) : ತಮೋಗುಣ ಸಂಬಂಧವಾದ ಕಾರಣತನು
ಕೊಂಬಿಲ್ಲದ ಮರ (ಬೆ) : ತಾಳವೃಕ್ಷದ ಗುಣ ಧರ್ಮವನುಳ್ಳ ದೇಹ
ಕೊಂಬು (ಬೆ) : ಅಹಂಕಾರ, ಸರ್ವಾಚಾರ ಸಂಪತ್ತು
ಕೊಕ್ಕರ (ಬೆ) : ವಿಪರೀತಭಾವ
ಕೊಡ (ಬೆ) : ಘಟ, ಶರೀರ
ಕೊಡಗೂಸು (ಬೆ) : ಚಿತ್‌ಶಕ್ತಿ

ಕೊಡಗೂಸು : ಮದುವೆಮಾಡಿ ಕೊಡ ಬೇಕೆಂದಿರುವ ಕನ್ಯೆ
ಕೊಂಡಮಾರು : ಕೊಂಡಬೆಲೆಗೆ ಮಾರು, ಲಾಭವಿಲ್ಲದುದು
ಕೊಂತ : ಭರ್ಚಿ, ಆಯುಧ
ಕೊರಳು (ಬೆ) : ಆಧಾರ
ಕೊರೆಕೂಳು (ಬೆ) : ಭೋಗಾಧಿ ಸ್ಥಿತಿ–ಗತಿ
ಕೊರೆಕೂಳು : ಹೊಟ್ಟೆಗೆ ಸಾಕಾಗದಷ್ಟು ಆಹಾರ
ಕೋಟೀರ : ಜಟೆ, ಜಡೆ, ಶಿಖೆ, ಶಿಖರ
ಕೋಡು : ತಣ್ಣಗಾಗು
ಕೋಡಗ (ಬೆ) : ಮನಸ್ಸು, ಉನ್ಮನೀತತ್ವ
ಕೋಣ (ಬೆ) : ಅಜ್ಞಾನಿಯಾದ ಜೀವಪಶು
ಕೋಲಂಬು : ಬಾಣ
ಕೋಲು : ಬಾಣ, ಬಡಿಗೆ
ಕೋಳ್ : ಸುಲಿ
ಕೋಳಾಗು : ಕೋಳುವೋಗು; ಬಂದಿಯಾಗು
ಕೋಳಿ (ಬೆ) : ವೃತ್ತಿಜ್ಞಾನ, ಸತ್ತ್ವಗುಣವ
ಕೌಪು (ಪ) : ಕೌಪೀನ, ಲಂಗೋಟಿ
ಖಂಡ : ಅಪೂರ್ಣ, ಭಿನ್ನ
ಖಂಡಕಪಾಲ (ಬೆ) : ಖಂಡಿತಜ್ಞಾನ
ಖಂಡಭಂಡ (ಬೆ) :ಇಂದ್ರಿಯಕರಣವೆಂಬ ಸಾಧನದ್ರವ್ಯ
ಖಂಡಭಂಡ : ಭಿನ್ನಭಿನ್ನವಾದ ಸರಕು
ಖಂಡಮಂಡಲ (ಬೆ) : ಖಂಡಿತಜ್ಞಾನ
ಖಂಡಿತ : ಅಪೂರ್ಣ
ಖಗರಂಧ್ರ (ಬೆ) : ಬ್ರಹ್ಮರಂಧ್ರ
ಖಟ್ವಾಂಗ : ಶಿವನು ಹಿಡಿದಿರುವ ಎಲುವಿನ ಆಯುಧ
ಖೇಚರಾದಿಯ ಗಮನ (ಬೆ) : ವಿವೇಕದ ಗಮನಾಗಮನ
ಖೇತಿಗತಿ : ಸುಖ ಪ್ರಯಾಣ, ಸುರಕ್ಷಿತ ಮಾರ್ಗ

**ಗ, ಘ**

ಗಂಗಾದೇವಿ (ಬೆ) : ಜ್ಞಾನಶಕ್ತಿ
ಗಂಗೆ (ಬೆ) : ಪರಾಶಕ್ತಿ
ಗಂಗೆ ಗೌರಿ(ಬೆ) : ಆದಿಶಕ್ತಿ, ಪರಾಶಕ್ತಿ
ಗಂಡ (ಬೆ) : ಗುರು, ಲಿಂಗಪತಿ, ಪ್ರಾಣ ಧರ್ಮ
ಗಂಡಗಂಡರು (ಬೆ) : ಮಹಾಜ್ಞಾನಾರೂಢರು
ಗಂಡೆ (ಸಂ, ಗ್ರಂಥಿ) : ತುರಿಸುವ ಗುಳ್ಳೆ, ಗಂಟು
ಗಗನ (ಬೆ) : ಆತ್ಮ, ಬಯಲು, ಚಿದಾಕಾರ, ಬ್ರಹ್ಮರಂಧ್ರ, ಪರಮಾತ್ಮ
ಗಗನಮಂಡಲ (ಬೆ) : ಬ್ರಹ್ಮರಂಧ್ರ
ಗಗನಸಿದ್ಧಾಂತ (ಬೆ) : ಆತ್ಮತತ್ವವಿದ್ಯೆ, ಆತ್ಮಜ್ಞಾನ
ಗಜ (ಬೆ) : ೧. ಅಹಂಕಾರ ೨. ಸೋಹಂ ಎಂಬ ಮದ
ಗಡಣಿಸು : ಗುಂಪುಗೂಡಿಸು, ಎಡೆಮಾಡು, ಒಟ್ಟು
ಗಮನ (ಬೆ) : ಅನುಭಾವದ ಅನುವರ್ತನೆ
ಗರಿಯ ಗಾಳಿ (ಬೆ) : ಪ್ರಪಂಚ ಕ್ರೀಡೆ
ಗುರುವ : ಶ್ರೇಷ್ಠ, ಸೊಕ್ಕು
ಗಸಣಿ : ಚಿಂತೆ, ದುಃಖ
ಗಳಹು : ಹರಟೆ, ಹರಟೆಹೊಡೆ, ಜಂಭದ ಮಾತು
ಗಾಡಿಗ : ಗಾರುಡಿಗ, ಮಾಟಗಾರ
ಗಾರುಮಾತು : ನಿಂದೆ, ಸೊಕ್ಕಿನ ಹುಂಬ ಮಾತು
ಗಾಳಿಯ ಧೂಳಿ (ಬೆ) :ರಜೋಗುಣಯುಕ್ತ ವಿಕಾರ
ಗಿಡು (ಬೆ) : ೧. ಶರೀರ ೨. ಸದ್ವಿವೇಕವೆಂಬ ಶಿಶು ೩. ವಿವೇಕವೆಂಬ ಗಿಡ. ೪. ವಿವೇಕ ವೃಕ್ಷಸ್ವರೂಪನಾದ ಶರಣ

ಗಿಟಿಗಿಟಿಜಂತ್ರ : ತೊಗಲು ಎಲುವು ಮಾತ್ರವುಳ್ಳ ದೇಹ
ಗಿಣ್ಣ (ಬೆ) : ಮಾಯಾಸುಖ
ಗಿಣ್ಣಿಲು : ಗಿಂಡಿ. ಬಟ್ಟಲು
ಗಿರಿ (ಬೆ) : ನಾಸಿಕಾಗ್ರವೆಂಬ ಗಿರಿ, ಬ್ರಹ್ಮರಂಧ್ರ
ಗಿಲವಾರ್ತೆ : ಗುಳುಗುಳು ಮಾತು
ಗಿಳಿ(ಣಿ) (ಬೆ) : ಜೀವಾತ್ಮ, ಜೀವಹಂಸ, ಪರಮಹಂಸ, ಪರಮಾತ್ಮ
ಗಿಳಿವಿಂಡುಗೆಡೆ : ಸ್ವಾನುಭಾವವಿಲ್ಲದೆ ಮಾತಾಡು
ಗುಣ್ಪು : ಆಳ, ಗುಂಫ
ಗುರಿಕೆ : ಗೊರಕೆ
ಗುಸುಟು : ಕೆಟ್ಟವಾಸನೆ, ಕಮಟು
ಗುಹ್ಯ : ಗೂಢ, ಗೌಪ್ಯ
ಗೆಗ್ಗವಾಯ್ದುಕೊಳ್ಳು : ಬಡಬಡಿಸು, ಬಡಬಡಕೊಂಡು ಮಾತಾಡು
ಗೇಣುದ್ದ ಎತ್ತು (ಬೆ) :ಸೂಕ್ಷ್ಮಜೀವಾತ್ಮ
ಗೊತ್ತು : ಉದ್ದೇಶಿತ ಸ್ಥಾನ
ಗೊರತಿ (ಬೆ) : ಜ್ಞಾನಶಕ್ತಿ
ಗೊರವ (ಬೆ) : ಸುಜ್ಞಾನಲಿಂಗ, ಶಿವ
ಗೊರವ : ಶ್ರೇಷ್ಠ ಮನುಷ್ಯ
ಗೊರವಿತಿ (ಬೆ) : ಶರಣಸತಿ
ಗೋ (ಬೆ) : ಪ್ರಾಣವಾಯು
ಗೋಸಾಸಿರ (ಬೆ) : ಸಹಸ್ರ ಸೂಕ್ಷ್ಮನಾಳಗಳಲ್ಲಿ ಸಂಚರಿಸುವ ಪ್ರಾಣವಾಯು
ಗ್ರಾಮ : ಸಮೂಹ
ಗೌರಿ (ಬೆ) : ೧. ಪರಾಶಕ್ತಿ ೨.ಕ್ರಿಯಾಶಕ್ತಿ, ಕ್ರಿಯಾಶಕ್ತಿಯ ಪ್ರತೀಕ
ಗ್ರಹ (ಬೆ) : ಜೀವನೆಂಬ ಭ್ರಮೆ
ಗ್ರಾಮ (ಬೆ) : ತನು, ಭೂತತ್ವ
ಘಟಜೀವಿ : ಶರೀರ ಧರಿಸಿದ ಪ್ರಾಣಿ
ಘನ : ಅವಿರಳ ಪರವಸ್ತು, ಶ್ರೇಷ್ಠ
ಘುಟಿಕೆ : ಗುಳಿಕೆ
ಘುಟಿಕಾಸಿದ್ಧರು : ವಿಕಾರಿಸಿದ್ಧರು

**ಚ, ಛ**

ಚಂದ್ರ (ಬೆ) : ೧. ಇಡಾನಾಡಿ ೨. ಶಾಂತಿ ೩. ಶಕ್ತಿ ೪. ಪ್ರಕೃತಿ
ಚಂದ್ರಕಾಂತದ ಕೊಡ (ಬೆ) :ಶಿವಯೋಗಿಯ ಕಾಯ
ಚಂದ್ರಗಿರಿ ಪಟ್ಟಣ (ಬೆ) : ಅಂತರಂಗ
ಚಂದ್ರಮ (ಬೆ) : ೧. ವೃತ್ತಿಯನ್ನುಳಿದು ಪರಮಶಾಂತಿ ಎನಿಸುವ ಚಿತ್ತಿನ ನಿಲವು ಸುಜ್ಞಾನ. ೨. ಚಿದಮೃತ ಸ್ವರೂಪ ನಾದ ಚಿತ್ಕಲಾಲಿಂಗ
ಚಂದ್ರಾಹಾರ (ಬೆ) : ಅಮೃತಹಾರ
ಚಚ್ಚರಗೋಷ್ಠಿ : ಚರ್ಚಾಗೋಷ್ಠಿ, ವಾದವಿವಾದ
ಚರುರಸ (ಸಂ. ಚತುರಶ) :ಚಚ್ಚೌಕಾರದ ವಸ್ತು, ಅಂತಃಕರಣ ಚತುಷ್ಟಯ
ಚತುರಸದೊಳಗಣ ನಿಲವು (ಬೆ) :ಪರಮ ಚೈತನ್ಯಾತ್ಮನ ಸ್ವರೂಪ
ಚಯ : ಸಮೂಹ
ಚರಣ (ಬೆ) : ಸಚ್ಚರಿತ
ಚಲ್ಲಣ : ಚೊಣ್ಣ, ಚಡ್ಡಿ
ಚಿಕ್ಕಾಡು (ಬೆ) : ಅಣುಮಾತ್ರವಪ್ಪ ಚಿತ್ತು
ಚಿಕ್ಕುಟ : ಸಣ್ಣ, ಚಿಕ್ಕ
ಚಿಕ್ಕುಟ ಸಾವು : ಕ್ಷುದ್ರರೀತಿಯ ಮರಣ
ಚಿಕ್ಕುಟ ಸಾವು (ಬೆ) : ಜನನಮರಣವಪ್ಪ ನಿದ್ರೆ
ಚಿತ್ತಭಸ್ಮ (ಬೆ) : ಚಿದ್ಭಸ್ಮ
ಚಿತ್ರ (ಬೆ) : ಲಿಂಗ
ಚಿತ್ರಗುಪ್ತರ ಕೈಯ ಪತ್ರ (ಬೆ) : ಸಂಚಿತ, ಪ್ರಾರಬ್ಧ, ಆಗಾಮಿ ಎಂಬ ಕರ್ಮ ಲಿಖಿತ

ಚಿತ್ರವಿಚಿತ್ರ (ಬೆ) : ಪರಬ್ರಹ್ಮ
ಚೇಗೆ : ಹಾನಿ
ಚೇಳು (ಬೆ) : ಮಿಥ್ಯೆ
ಚೋಹ : ವೇಷ. ತೊಡುವ ಬಟ್ಟೆ
ಚೌಕದವೆರಡು ಕಂಭ (ಬೆ) : ಶಿವ ಮತ್ತು ಶಕ್ತಿ
ಚೌಕಮಧ್ಯ (ಬೆ) : ಆಧಾರಚಕ್ರ
ಚೌದಂತ : ಐರಾವತ
ಚೌರಾಶಿ. ಚೌರಾಶೀತಿ : ಅರವತ್ತುನಾಲ್ಕು
ಛತ್ತೀಸಪುರ (ಬೆ) : ಮೂವತ್ತಾರು ತತ್ವಗಳು
ಛಪ್ಪನ್ನವೀದಿ (ಬೆ) : ಐವತ್ತಾರು ಸೂಕ್ಷ್ಮ ನಾಳಗಳು
ಛಾದನ : ಹೊದಿಕೆ

ಜ. ಝ

ಜಂಗುಳಿ : ಗುಂಪು. ದನದ ಹಿಂಡು
ಜಂಘೆ : ಮೀನಗಂಡ. ಮೇಲ್ತೊಡೆ
ಜಂತ್ರಿಸು : ಹೂಡು. ಯೋಜಿಸು
ಜಂಬೂದ್ವೀಪ (ಬೆ) : ಸ್ಥೂಲತನು
ಜಗದಗಲದ ಆನೆ (ಬೆ) :ಪರಿಪೂರ್ಣಭಾವ
ಜಗದಗಲದ ಮಂಟಪ(ಬೆ): ೧. ಚಿದಾಕಾಶವೆಂಬ ಶರೀರ ಮಂಟಪ ೨.ಲೋಕದ ವ್ಯವಹರಣೆ
ಜಗದ ಬಣ್ಣ (ಬೆ) : ಚಿದಾಕಾಶವೆಂಬ ಶರಣನ ಶರೀರ ಮಂಟಪ
ಜಟಾಧಾರಿ (ಬೆ) : ಸತ್‌ಕ್ರಿಯಾಚರಣೆ ಯುಳ್ಳವ
ಜಡೆಯ ಮೇಲಣ ಗಂಗೆ (ಬೆ) :ಬ್ರಹ್ಮರಂಧ್ರದಲ್ಲಿರುವ ಪರಾಶಕ್ತಿ
ಜರಗ : ಮಣ್ಣು ಮಿಶ್ರಿತ ಬಂಗಾರದ ಹುಡಿ
ಜಲ : (ಬೆ) : ೧. ಶುಕ್ಲ ಶೋಣಿತ ಆತ್ಮ ಸಂಗದಿಂದಾದ ಜಲಬುದ್ಬುದ ಪಿಂಡ ೨. ಮನಸ್ಸು ೩. ಸಂಸಾರರಸ
ಜಲಗರ : ಜಲೋದರ ರೋಗ
ಜಲದಿವಳಯದ ಬೆಳಸು (ಬೆ) : ೧. ಸರ್ವಾಂಗ ಲಿಂಗಮಯವಾಗಿರದ ಶರಣನ ಲಿಂಗದ ಬೆಳಸು
ಜವ (ಬೆ) : ಜನನ ಮರಣಾತ್ಮಕ ಭವ
ಜವ : ಯಮ
ಜವನ ಕದ್ದ ಕಳ್ಳ (ಬೆ) : ಮೃತ್ಯುವನ್ನು ಜಯಿಸಿದವ. ಶಿವ
ಜವಳಿಗಂಬ (ಬೆ) : ಲಿಂಗನಿಷ್ಠೆ
ಜವನಿಕೆ : ಪರದೆ
ಜವಳಿಗಂಬ : ಜೋಡುಗಂಬ
ಜವುಗು : ಜವುಳು. ನೀರು ಹಿಡಿದ ಭೂಮಿ
ಜಾಣೆಗೆ : ಜಾಣ್ಮೆ
ಜಾಯಿಗ : ವ್ಯಕ್ತಿಯ ಹೆಸರು. ಸ್ವಜಾತಿಯವ. ನಾಯಿ
ಜಾಲಗಾರ : ಲಿಂಗದ ಮೇಲೆ ನಂಬಿಗೆ ಯಿಲ್ಲದ ತಕ್ಕ
ಜಿಹ್ವೆ (ಬೆ) : ಪರಮಾಮೃತ
ಜೋಗುಳ (ಬೆ) : 'ಶಿವೋऽಹಂ' ಎಂಬ ನಾದ
ಜೋಡು : ಯೋಧನ ಉಕ್ಕಿನ ಅಂಗಿ. ಚಿಲಕತ್ತು
ಜ್ಯೋತಿ (ಬೆ) : ಮಹಾಜ್ಞಾನ ಪ್ರಕಾಶ. ಚಿಜ್ಯೋತಿ. ಪರಬ್ರಹ್ಮ

ಟ. ಠ

ಠಣಾಂತರ : ಸ್ಥಾನಾಂತರ
ಠಾವು : ಸ್ಥಾನ. ಸ್ಥಳ. ರಹಸ್ಯ
ಠೊಪ್ಪರ (ಟೊಪ್ಪರ) : ಕಿವಿಟೊಪ್ಪಿಗೆ. ಕುಲಾಯಿ

ಡ. ಢ

ಡಾಣೆ : ಡೊಣ್ಣೆ. ಬಡಿಗೆ. ಧಾನ್ಯ. ಕಾಳು
ಡಾವರಿಸು : ಅತಿಯಾಗಿ ಅಪೇಕ್ಷಿಸು. ಸಂಭ್ರಮಿಸು

ಡಿಂಗರಿಗ : ಸೇವಕ
ಢಾಳ : ಕಾಂತಿ, ಹೊಳಪು
**ತ, ಥ**
ತಂಡುಲ : ಅಕ್ಕಿ
ತಕ್ಕೈಸು : ಆಲಿಂಗಿಸು
ತಗಹು : ಆತಂಕ, ಅಡ್ಡಿ
ತತಿ : ಸಮೂಹ
ತತ್ತ : ಸರಿಯಾದ
ತತ್ತರಿದರಿ : ಚೂರುಚೂರಾಗಿ ಕತ್ತರಿಸು
ತದುಗತ : ತದ್ಗತ, ಅದರಲ್ಲಿ ಕೂಡಿದ
ತಪ್ಪುಕ : ಅಪರಾಧಿ
ತಮ್ಮಡಿ : ಪೂಜಾರಿ, ಪೂಜೆಗೆ ನೆರವಾಗುವ ಸೇವಕ
ತರತರಂಬೋಗು : ಆನಂದಾತಿಶಯದಿಂದ ನಡುಗು
ತರಹರವಾಗು : ಹೊಂದಿಕೊಳ್ಳು, ಶಾಂತವಾಗು, ಲೀಯವಾಗು
ತರಗೆಲೆ (ಬೆ) : ದುಶ್ಚರಿತಂಗಳು, ಸಂಸಾರ ಪ್ರಪಂಚುಗಳು
ತರಕಟವಾಡು : ಅತಿಯಾಗಿ, ಭಯಂಕರವಾಗಿ ಪೀಡಿಸು
ತರುವಕ್ಕಳು : ಸಣ್ಣ ಹುಡುಗರು
ತರುವಲಿ : ಚಿಕ್ಕಮಗು
ತಲೆ (ಬೆ) : ಜ್ಞಾನದ ತೂರ್ಯವೆಂಬ ವೃತ್ತ, ಸುಜ್ಞಾನ, ಮಹಾಜ್ಞಾನ
ತಲೆಕಾಲು (ಬೆ) : ಜ್ಞಾನಕ್ರಿಯೆ
ತಲೆಗೊಳ್ಳು (ಬೆ) : ಮಹಾಜ್ಞಾನ
ತಲೆಬಾಲಗೆಡು : ದಿಕ್ಕುತೋಚದಾಗು
ತಲೆಯಾತ (ಬೆ) : ಶುದ್ಧಜ್ಞಪ್ತಿಯೆ ಶಿರಸ್ಸಾಗಿರುವ ಪರಬ್ರಹ್ಮ
ತಲೆಯಿಲ್ಲದ ಮುಂಡ (ಬೆ) : ಮಾಯಾ ಭ್ರಾಂತಿ
ತಲೆಯಿಲ್ಲದ ಮೃಗ (ಬೆ) : ೧. ಮಾಯೆ ೨. ವೃತ್ತಿಜ್ಞಾನವಿಲ್ಲದ ಸಜ್ಜೀವಾತ್ಮ
ತಲೆಯಿಲ್ಲದ ಶಿಷ್ಯ (ಬೆ) : ಅಖಂಡ ಜ್ಞಾನವುಳ್ಳ ಶಿಷ್ಯ
ತಲೆವರಿಗೆ : ಶಿರಸ್ತ್ರಾಣ, ಡಾಲು, ಗುರಾಣಿ
ತಲೆವಾರನಿಕ್ಕು : ಬಾಗು, ಖಡ್ಗವಿಕ್ಕು
ತವರಾಜ : ಯವಾಸ (ಯಾಸ) ಹೆಸರಿನ ವನಸ್ಪತಿಯಿಂದ ತೆಗೆದ ಸಕ್ಕರೆ, ಹಗಿನದಿಂದಾದ ಸಕ್ಕರೆ
ತಳಕಂಬ (ಬೆ) : ಏಕೋಭಾವ
ತಳವಾರ (ಬೆ) : ೧. ಶರಣ ೨. ಚಿದುಂಶಿಕನಾದ ಆತ್ಮ
ತೃಣ (ಬೆ) : ಪ್ರಪಂಚವೆಂಬ ಹುಲ್ಲು
ತಾರ್ಕಣೆಯಾಗು : ನಿಜವಾಗು
ತಾಯ ಹೆಣ (ಬೆ) : ಜಾತಿ ವರ್ಣ ನಾಮಂಗಳು
ತಾಯಿ (ಬೆ) : ಚಿತ್‌ಶಕ್ತಿ, ಮಾಯೆ. ಶರಣ
ತಾರಕಿ (ಬೆ) : ಪರಮಚಿತ್ಕಲಾಲಿಂಗ
ತಾಳಮರ (ಬೆ) : ತನುವೆಂಬ ವೃಕ್ಷ, ಅಷ್ಟಮದಯುಕ್ತ ಶರೀರ
ತಾಳಿ : ಕುಳ್ಳಿನಿಂದ ಮಾಡಿದ ಕಿಚ್ಚು
ತಿಂಥಿಣಿ : ಸಮೂಹ
ತಿಂಬ : ತುರಿಡುವ, ನವೆಯಾಗುವು
ತಿರುಳು (ಬೆ) : ನಿರ್ಬೀಜವಾಗಿರುವ ಪರತತ್ವ
ತುಡುಕು : ಮೇಲೆಬಿದ್ದು ಹಿಡಿ
ತುಡುಗುಣಿ : ತುಡುಗುಮಾಡಿ ಉಣ್ಣುವ ಪ್ರಾಣಿ
ತುಪ್ಪ (ಬೆ) : ಚಿತ್ತು, ತೃಪ್ತಿ, ಸ್ವಾನುಭಾವದ ಸ್ವಾದನೆ
ತುಪ್ಪುಳು (ಬೆ) : ಕುರುಹು
ತುಂಬಿ (ಬೆ) : ೧. ಪರಿಪೂರ್ಣವಸ್ತು, ಲಿಂಗ ೨. ಪರಿಪೂರ್ಣಭಾವ, ೩. ಜ್ಞಾನ, ೪. ಜೀವಹಂಸ

ತುಂಬಿದ ತೊರೆ (ಬೆ) : ಸಂಸಾರ ಜಲ ಪ್ರವಾಹ
ತುಂಬು, ತೂಬು (ಬೆ) : ನವನಾಳಗಳು
ತುಯ್ಯಲು : ಅಕ್ಕಿಯ ಪಾಯಸ, ಪರಮಾನ್ನ
ತುರೀಯ : ಕೊನೆಯ, ನಾಲ್ಕನೆಯ ಅವಸ್ಥೆ
ತುಕ್ಷ : ತೌಡು, ಹೊಟ್ಟು
ತೂಳು : ಹಲ್ಲೆ ಮಾಡು, ಮೈಮೇಲೆ ಬೀಳು
ತೆಗೆ : ಹಿಡಿದು ಮೇಲೆತ್ತು
ತೆರಣಿಗಟ್ಟು : ಸುತ್ತ ಬಿಗಿದು ಕಟ್ಟು
ತೆರಹು : ಅಂತರ, ಸಂದು, ಅವಕಾಶ, ಭಿನ್ನಭಾವ
ತೆರೆಮರೆ : ತೆರೆದ, ಮರೆಯಾದ
ತೆವರು (ಬೆ) : ಆಧಾರಸ್ಥಾನವಾಗಿರುವ ಶಿವಭಾವ
ತೇಜ (ಬೆ) : ಜ್ಞಾನಾಗ್ನಿ
ತೊಟ್ಟಿಲು (ಬೆ) : ದೇಹ, ದೇಹಭಾವ
ತೊಡಕು (ಸರಿದೊಡಕು) :ಬಿಚ್ಚಲು ಬಾರದ ಗುಂಡು
ತೊಡೆ : ಒರೆಸಿ, ತೆಗೆ, ಒರೆಸು
ತೊಡೆಯ ಮೇಲಿಪ್ಪ ಗೌರಿ (ಬೆ) : ಆಧಾರ ಸ್ಥಾನದಲ್ಲಿರುವ ಆದಿಶಕ್ತಿ
ತೊತ್ತಳದುಳಿ : ಕಾಲಲ್ಲಿ ಹಾಕಿ ತುಳಿ
ತೊರೆ (ಬೆ) : ಹರಿವ ಮನ
ತೋಟ (ಬೆ) : ತನುವೆಂಬ ತೋಟ
ತೋರ : ದಪ್ಪ, ಗಡುತರ
ತೋರಲಿಲ್ಲದ ಬಿಲ್ಲು (ಬೆ) : ಭಿನ್ನಭಾವ ವಿಲ್ಲದ ಸದ್ಭಾವ
ತೋಹು : ಬೇಟೆಯ ಕಾಲಕ್ಕೆ ಕೂಡುವ ಜಾಗ
ತ್ರಾಸು ಕಟ್ಟಳೆ : ಸರಿಯಾದ ತೂಕ ತೋರಿಸುವ ತಕ್ಕಡಿ, ತೂಕಕ್ಕೆ ಸಂಬಂಧಿಸಿದ ನಿಯಮಗಳು
ತ್ರಾಹಿ : ಕಾಪಾಡು
ತ್ರಿಕೂಟ (ಬೆ) : ಭ್ರೂಮಧ್ಯ
ತ್ರಿಕೋಣದ್ವಾರ ಮಂಟಪ (ಬೆ) : ಮಣಿಪೂರಕಚಕ್ರ
ತ್ರಿಪುರ (ಬೆ) : ಅಂಗತ್ರಯ
ತ್ರಿಭುವನ (ಬೆ) : ಸ್ಥೂಲ-ಸೂಕ್ಷ್ಮ–ಕಾರಣ ಶರೀರಗಳು
ಥಟ್ಟು ಗೆಡಹು : ರಾಶಿ ರಾಶಿಯಾಗಿ ಬೀಳಿಸು
ದ, ಧ
ದಂಡಿ : ಕ್ರೂರತನ
ದಂಡಿಗೆ : ಪಲ್ಲಕ್ಕಿ, ಮೇಣೆ
ದಂಡೆ : ಹೂವಿನ ದಂಡೆ
ದಂತವೆರಡು (ಬೆ) : ಸಂಕಲ್ಪ ವಿಕಲ್ಪ
ದಂದುಗ : ಕಷ್ಟ
ದಕ್ಷಿಣ (ಬೆ) : ಪೂರ್ವಕಕ್ಷೆಯೋಗ
ದಕ್ಷಿಣದ್ವಾರ (ಬೆ) : ಇಡಾನಾಡಿ
ದಡ (ಬೆ) : ದೇಹಧರ್ಮ
ದಡಿ : ದಂಡ, ಬಡಿಗೆ
ದಡಿಕಾರ : ಕೈಯಲ್ಲಿ ಬಡಿಗೆ ಹಿಡಿದ ದ್ವಾರಪಾಲಕ
ದಶಭುಜ (ಬೆ) : ದಶವಾಯು
ದಾಯ : ಭಾಗ, ಸ್ಥಳ, ಸಾಲು
ದಾರ (ಬೆ) : ಮನವೆಂಬ ಸೂತ್ರ, ಅನುಭಾವ
ದಾರಿ (ಬೆ) : ಮುಮುಕ್ಷುಮಾರ್ಗ, ಸಾಧನ ಮಾರ್ಗ
ದಾವತಿ : ದಣಿವು, ತೊಂದರೆ
ದಿವರಾತ್ರಿ (ಬೆ) : ಅರಿವು–ಮರವೆ
ದೀಪ್ತಿಯಾಗು : ಹೊಳೆ, ಪ್ರಕಾಶಿಸು
ದುಮ್ಮಾನ : ದುಃಖತಪ್ತಮನ
ದೂರದ ತುದಿಗೊಂಬು (ಬೆ) :ಪರಬ್ರಹ್ಮ
ದೂರಿಕೊಳ್ಳು : ಹಳಿ, ನಿಂದಿಸು
ದೃಷ್ಟಿವಾಳಕ : ಲಕ್ಷ್ಯವನ್ನು ಒಂದೇ ವಿಷಯದಲ್ಲಿ ತೊಡಗಿಸಿದ

ದ್ವಾರ (ಬೆ) : ಯೋನಿದ್ವಾರ
ದೃಷ್ಟಿವಾಳಕ (ಬೆ) : ನಿಜವನ್ನು ಕಂಡವ
ದೇವಕನ್ನಿಕೆ (ಬೆ) : ಜ್ಞಾನಶಕ್ತಿ
ದೇವಲೋಕದ ಪುಷ್ಪ (ಬೆ) : ಸಹಸ್ರದಳ ಕಮಲ
ದೇಶ (ಬೆ) : ಶಿರೋಲಿಖಿತ
ದೇಹಾರ : ದೇವರ ಮನೆ, ದೇಹಕ್ಕೆ ಬೇಕಾದ ಆಹಾರ
ದ್ರೋಣ : ಬಿಲ್ಲು
ಧರೆಯಾಕಾಶ (ಬೆ) : ದೇಹ ಮತ್ತು ಪರಮಾತ್ಮ ತತ್ವ
ಧವಳಾರ (ಬೆ) : ಮಹಾನುಭಾವಾಂತರಂಗ
ಧವಳಾಕಾರ, ಧವಳಾಗಾರ : ಭವ್ಯ ಭವನ, ಶುದ್ಧ ಸ್ಫಟಿಕದಂತಿರುವ ಮನೆ
ಧಾರಾವಟ್ಟಲು : ಧಾರಾಪಾತ್ರೆ, ಸೋರುವ ಬಟ್ಟಲು
ದಾರಾವರ್ತ (ಬೆ) : ಸಂಸಾರವೆಂಬ ಮಳೆ
ಧಾರುಣಿ (ಬೆ) : ೧. ಪಿಂಡ ೨. ಲಿಂಗಕ್ಷೇತ್ರ ವೆನಿಸಿದ ಶರಣನ ಸರ್ವಾಂಗ
ಧಾರೆವಟ್ಟಲು (ಬೆ) : ಮಹಾನುಭಾವ ವಿವೇಕ, ಸುವಿಚಾರ
ಧಿಗಿನೆಲೆ : ಕೂಡಲೆ, ಜಾಗ್ರತೆಯಾಗಿ

ನ

ನಂದಿ (ಬೆ) :ಪ್ರಥಮದಲ್ಲಿ ಅಂಗವಿಲ್ಲದಳವಟ್ಟ ಚಿತ್ತು
ನ (ಬೆ) : ಚಿತ್ತ
ನಖ (ಬೆ) : ಏಕಾಗ್ರಚಿತ್ತವೆಂಬ ಕೃತನಿಶ್ಚಯ
ನ-ಖ-ಕಂ-ಕಣ (ಬೆ) : ನಷ್ಟೇಂದ್ರಿಯ ಸಂಸಾರ ಜಲಬಿಂದು (ಇದು ಇಪ್ಪತ್ತೈದು ತತ್ವಯುಕ್ತ)
ನಡುನೀರ (ಬೆ) : ಮನೋಮಧ್ಯ
ನಡುರಂಗ (ಬೆ) : ಸಂಸಾರ ಭಾವವಳಿದ ಅಂತರಂಗ
ನಡೆಯದ ಬಟ್ಟೆ (ಬೆ) : ಪಶ್ಚಿಮದ್ವಾರ
ನಡೆವ ಮೂರುಬಟ್ಟೆ (ಬೆ) : ತ್ರಿನಾಳಗಳು
ನಡೆವ ಸತಿ (ಬೆ) : ಕ್ರಿಯಾಶಕ್ತಿ
ನೆನೆ : ಮೊಗ್ಗೆ, ಮೊಗ್ಗು
ನನ್ನಿ : ಸತ್ಯ
ನಯನ (ಬೆ) : ೧. ಜ್ಞಾನನೇತ್ರ ೨. ಮಹಾಜ್ಞಾನದೃಷ್ಟಿ
ನವರತ್ನದ ಖಂಡಿತಹಾರ (ಬೆ) : ನವಲಿಂಗ ಪ್ರಯುಕ್ತವೆನಿಸುವ ಜ್ಞಾನ
ನವಸಾಸಿರ ಮಂದಿ (ಬೆ) : ಸೂಕ್ಷ್ಮತರವೆನಿಸುವ ಸಕಲಕರಣಂಗಳು
ನಾಗವತ್ತಿಗೆ : ಲಿಂಗದ ಕರಡಿಗೆ, ಕೊರಳಿಗೆ ತೂಗುಹಾಕಿದ ಲಿಂಗ
ನಾಟಿ (ಬೆ) : ಇಷ್ಟಲಿಂಗ
ನಾದ (ಬೆ) : ಶಿವ
ನಾದಬಿಂದು (ಬೆ) : ನಾದಬಿಂದು, ಸಂಜ್ಞೆಯಾದ ಶಿವ ಶಕ್ತಿ ಪಿಂಡ
ನಾಭಿಮಂಡಲ (ಬೆ) : ಮಣಿಪೂರಕಚಕ್ರ
ನಾಯಿ (ಬೆ) : ಇಂದ್ರಿಯ
ನಾರಿ : ಬಿಲ್ಲಿನ ಹಗ್ಗ
ನಾರಿ (ಬೆ) : ಮಾಯೆ, ಪರಾಶಕ್ತಿ, ತತ್ವದ ಜ್ಞಾನ, ಶಿವಭಾವ
ನಾರಿವಾಳ(ಣ) : ತೆಂಗು
ನಾರಿವಾಣ(ಳ) (ಬೆ) : ಇಷ್ಟಲಿಂಗ
ನಾರವಾಳದ ಕಾಯಿ (ಬೆ) : ಅಂಗ
ನಾರಿವಾಳದ ಸಿನೆ (ಬೆ) : ಇಷ್ಟಾರ್ಥ ಸಿದ್ಧಿಯ ಕೊಡುವ ಇಷ್ಟಲಿಂಗ
ನಾರು : ವಾಸನೆ, ಭವಪಾಶ
ನಾರು (ಬೆ) : ಪ್ರಾಣವಾಯುವನ್ನು ಸುತ್ತಿಕೊಂಡಿರುವ ಭವಪಾಶ
ನಾಲ್ವೈದು ವೀಧಿ (ಬೆ) : ದಶವಾಯು ಮತ್ತು ದಶೇಂದ್ರಿಯಗಳೆಂಬ ಇಪ್ಪತ್ತು ಬೀದಿಗಳು

ನಾಲ್ವೆರಳು (ಬೆ) : ಚತುಃಪತ್ರದ ಕುಂಡಲಾಗ್ನಿ
ನಾಸಿಕ (ಬೆ) : ಸದ್ವಾಸನೆ
ನಿಚ್ಚ (ಸಂ. ನಿತ್ಯ) :ಪ್ರತಿದಿನ
ನಿಜ : ಪರವಸ್ತು, ಐಕ್ಯಸ್ಥಿತಿ, ಸಾಕ್ಷಾತ್ಕಾರ
ನಿನ್ನೆ (ಬೆ) : ಪೂರ್ವಾಶ್ರಯ
ನಿಬ್ಬೆರಗು : ಅತ್ಯಾಶ್ಚರ್ಯ
ನಿಬ್ಬಣಿಗರು (ಬೆ) : ವಿಶ್ವ
ನಿಭ್ರಾಂತು : ಭ್ರಾಂತಿಯಿಲ್ಲದಿರುವಿಕೆ
ನಿಬ್ಬಣಗಿತ್ತಿಯರು (ಬೆ) : ಇಷ್ಟಾದಿ ಷಡುಶಕ್ತಿಯರು
ನಿಭದ್ರೆ (ಬೆ) : ಮಾಯಾಶಕ್ತಿ
ನಿರಂಜನ (ಬೆ) : ಜ್ಞಾನತನು
ನಿರವಯ (ಬೆ) : ಶಿವಕಳೆ
ನಿರವಯವಾಗು : ಲಯವಾಗು, ಮೂಲ ಸ್ಥಿತಿಗೆ ಬರು
ನಿರಾಕುಳ : ದುಃಖವಿಲ್ಲದಿರುವುದು
ನಿರಾಲಂಬ: ಯಾವುದರ ಅವಲಂಬನವಿಲ್ಲದಿರುವ ನಿಲವು
ನಿರಾಲಂಬ (ಬೆ) : ಚಿದ್ಬಿಂದು
ನಿರಾಳ : ನುರ್ಗುಣ ನಿರಾಕಾರ ಅನಿರ್ವಾಚ್ಯ ವಸ್ತು
ನಿರಾಳವೆಂಬ ಶಿಶು (ಬೆ) : ಮಹಾಜ್ಞಾನ ತತ್ವ
ನಿರುಗೆ : ಜೋಡಣೆ, ರಚನೆ
ನಿರೂಪ : ರೂಪವಿಲ್ಲದ, ಅಸ್ಪಷ್ಟವಾದ ಮಹಾಲಿಂಗತತ್ವ
ನಿರ್ಮಾಲ್ಯ : ಪೂಜೆ
ನಿರ್ಮಿತಂಗಳು : ಹುಟ್ಟಿಸಲ್ಪಟ್ಟ ಜೀವರು, ವಸ್ತುಗಳು
ನಿರ್ವಯಲಾಗು : ಬಯಲಾಗು, ಲಿಂಗೈಕ್ಯ ವಾಗು, ತೊಲಗು
ನಿರ್ವಾಣ : ಬತ್ತಲೆ, ಏನೂ ಇಲ್ಲದಿರುವಿಕೆ
ನಿರ್ವಾಹವಾಗು : ಸಾಧ್ಯವಾಗು, ಗೊತ್ತಾಗು
ನಿವಾತ : ನಿಶ್ಚಲ
ನಿಶ್ಚಟರು : ನಿಷ್ಕಪಟಿಗಳು
ನಿಶ್ಚಯವಾಗು : ತೊಲಗು, ಚದುರಿಹೋಗು
ನಿಶ್ಚಲ ಮಂಟಪ (ಬೆ) : ಹೊಯ್ದಾಡದ ತನುವೆಂಬ ಮಂಟಪ
ನಿಃಕರಿಸು, ನೀಕರಿಸು : ಅಲ್ಲಗಳೆ
ನಿಃಕಲ : ಕಲೆಯಿಂದವಿರಹಿತವಾದ,ನಿರಾಕಾರ
ನಿಃಪತಿ, ನಿಷ್ಪತಿ, ನಿಷ್ಪತ್ತಿ : ಪರಿಪೂರ್ಣತೆ, ಸಿದ್ಧಿ
ನಿಃಪತಿಯಾಗು, ನಿಷ್ಪತಿಯಾಗು : ಮಾಗು, ಹಣ್ಣಾಗು
ನಿಃಸ್ಥಲ : ಸ್ಥಲಾತೀತವಾದ ವಸ್ತು
ನೀರಲಾದ ನಿರ್ಮಿತ (ಬೆ) : ಜಲಬುದ್ಬುದವಾದ ಪಿಂಡ
ನೀರಲೊಗೆದ ಮರ (ಬೆ) : ಮನೋಮಧ್ಯದಲ್ಲುದಯವಾದ ಸದ್ವಿವೇಕ ಪಕ್ಷ
ನೀರಸುಟ್ಟ ಕಿಚ್ಚಿನ ಬೂದಿ (ಬೆ) : ಮನಸ್ಸನ್ನು ಮೂಲಾಗ್ನಿಯಲ್ಲಿ ಸುಟ್ಟ ಬಳಿಕ ಉಳಿವ ಚಿದ್ಭಸ್ಮ
ನೀರಹರಿ (ಬೆ) : ಸ್ವಚ್ಛ, ಆನಂದ, ಜಲಪ್ರವಾಹ
ನೀರಿಳಿ : ಸೂತಕ ಸ್ನಾನಮಾಡು
ನೀರು (ಬೆ) : ೧. ಮನಸ್ಸು, ಮನದ ಸಂಚಲ ೨. ಜಲಬುದ್ಬುದ ಸಂಸಾರರಸ ೩. ಧ್ಯಾನಾನಂದಜಲ
ನೀಲ : ನೀಲಿಮನಿ, ಮಾಯೆ
ನೀಲ (ಬೆ) : ೧. ಅಜ್ಞಾನ ೨. ಮಾಯೆ
ನೂರಿಪ್ಪತ್ತುಕೋರೆದಾಡೆ (ಬೆ) :ನೂರಿಪ್ಪತ್ತು ಕರಣ ಮಥನಂಗಳು
ನೆಗಳ್ : ಹುಟ್ಟು
ನೆಗಳು : ಮೊಸಳೆ
ನೆಗಳು (ಬೆ) : ಕಾಲ, ಮೃತ್ಯು
ನೆತ್ತರು (ಬೆ) : ಸ್ವಚ್ಛಾನಂದರಸ

ನೆಮ್ಮುಗೆ : ನಂಬಿಕೆ, ಭಕ್ತಿ, ವಿಶ್ವಾಸ
ನೆರೆ : ಕೂಡು, ಸಹವಾಸಮಾಡು
ನೆರೆಮರುಳ (ಬೆ) : ಜೀವಾತ್ಮ
ನೆಲಗಟ್ಟು (ಬೆ) : ಸುಚಿತ್ತ
ನೆಲದ ಬೊಂಬೆ (ಬೆ) : ಪೃಥ್ವಿಯಾಂಶದ ತನು
ನೆಲನಿಲ್ಲದ ಭೂಮಿ (ಬೆ) : ಭಕ್ತಿಯೆಂಬ ಪಿಂಡ
ನೆಲಹುಟ್ಟಿದಂದಿನ ಧವಳಾರ (ಬೆ) : ಶರಣನ ಮಹಾನುಭಾವಾಂತರಂಗ
ನೆಲೆ (ಬೆ) : ೧. ಶರೀರ, ದೇಹ ೨. ಪೃಥ್ವಿ ತತ್ವ
ನೆಲೆಗಟ್ಟು : ಅಡಿಪಾಯ
ನೆಲೆ (ಬೆ) : ಶಿವಜ್ಞಾನದ ಸ್ವರೂಪ
ನೆಲೆಗತಿ : ಆದ್ಯಂತ, ರಹಸ್ಯ
ನೆಲೆಗೆಡು : ಸ್ಥಾನಭ್ರಷ್ಟವಾಗು, ಓಡಿಹೋಗು
ನೆಳಲು (ಬೆ) : ೧. ಉನ್ಮನಿ ತತ್ವದ ಸದ್ಭಾವ ಛಾಯೆ ೨. ಮರವೆ ೩. ಮನಸ್ಸು ೪. ಸುಶಾಂತಿ ೫. ಮಾಯೆ
ನೇಣು (ಬೆ) : ೧. ಸ್ವಾನುಭಾವಸೂತ್ರ ೨. ಭವಪಾಶ
ನೇತಿಗಳೆ : ಅಲ್ಲಗಳೆ, ತಿರಸ್ಕರಿಸು
ನೇರಿತ್ತು : ಹೊಂದಿಕೊಂಡು ಅಂದವಾಗಿರುವುದು
ನೇಹ : ಸ್ನೇಹ, ಪ್ರೀತಿ
ನೊಣ (ಬೆ) : ಜುಗುಪ್ಸಾಭಾವ, ಸಂಶಯ ಪ್ರವೃತ್ತಿ
ನೋಡ ಬಂದವರು (ಬೆ) : ಸಕಲಕರಣಂಗಳ ಭಿನ್ನದೃಷ್ಟಿ

ಪ, ಫ

ಪಂಚಮಠ (ಬೆ) : ಪಂಚಭೂತಗ್ರಾಮಂಗಳು
ಪಂಚಮುಖ (ಬೆ): ಪಂಚಜ್ಞಾನೇಂದ್ರಿಯಗಳು
ಪಂಚರತ್ನದ ಶಿಖರ (ಬೆ) : ಪಂಚವರ್ಣಾತ್ಮಕ ಬಿಂದು
ಪಂಚವರ್ಣದ ಹಂಸೆ (ಬೆ) : ಜೀವಹಂಸ
ಪಂಚಾಶತ್ : ಐವತ್ತು
ಪಕ್ಕ (ಬೆ) : ೧. ಭಕ್ತಿಜ್ಞಾನಗಳೆಂಬ ರೆಕ್ಕೆ ೨. ಅಂತರಂಗ ಬಹಿರಂಗವೆಂಬ ಉಭಯ ದಳ
ಪಕ್ಕವಿಲ್ಲದ ಹಕ್ಕಿ (ಬೆ) : ಪರಮಹಂಸ
ಪಕ್ಷಿ (ಬೆ) : ೧. ಜೀವ ೨. ಪರಮಹಂಸ ೩. ಮನಸ್ಸು
ಪಕ್ಷಿಯ ಮರಿಗಳು (ಬೆ) : ಮನದಿಂದ ಉದಿಸಿದ ಕರಣಂಗಳು
ಪಟ್ಟಣ (ಬೆ) : ಶರೀರ, ಅಂತರ್ದೇಹ
ಪಟ್ಟಣದ ರಾಣಿ (ಬೆ) : ಇಚ್ಛಾಶಕ್ತಿ
ಪಟುಮಾಡು : ಹೊತ್ತಿಸು
ಪಣತೆ (ಸಂ. ಪ್ರಣೀತೆ) : ಹಣತೆ
ಪದ : ಪದವಿ, ಸ್ಥಾನ
ಪದ (ಬೆ) : ಹಂಸನ ಚರಿತ್ರ
ಪದಶಿಲೆ (ಬೆ) : ಸುಚಿತ್ತವೆಂಬ ನೆಲೆಗಟ್ಟು, ಆಧಾರಸ್ಥಲ
ಪದಶಿಲೆ : ಆಹಾರ, ನೈವೇದ್ಯ
ಪರಮಾನಂದ ಮಠ (ಬೆ) : ಬ್ರಹ್ಮರಂಧ್ರವೆಂಬ ಪುರುಷದ ಪೀಠ
ಪರಿಕರ : ಸಲಕರಣೆ, ಸಾಮಗ್ರಿ
ಪರಿಣಾಮ : ತೃಪ್ತಿ, ಆನಂದ
ಪರಿಭವ : ಸಾವು–ನೋವು, ಸೋಲು
ಪರಿಭಾವ (ಬೆ) : ಪರಬ್ರಹ್ಮನ ನೆಲೆ
ಪರಿಮಳ (ಬೆ) : ೧. ಪರಿಪೂರ್ಣವಾಸನೆ ೨. ಭಿನ್ನ ಅನುಭವ ೩. ಸ್ವಾನುಭವವೆಂಬ ವಾಸನೆ
ಪರಿಯಾಣ : ಹರಿವಾಣ, ತಟ್ಟೆ
ಪರಿಯಾಯವಾಗು: ಮುಹೂರ್ತಮಾಡು, ಕುಳ್ಳಿರು

ಪರುಷವೇದಿ : ಮುಟ್ಟಿದ್ದನ್ನು ಚಿನ್ನ ಮಾಡುವ ಸ್ಪರ್ಶಮಣಿಯ ಸಾಮರ್ಥ್ಯ
ಪವನಸ್ಥಾನ (ಬೆ) :ಚೈತನ್ಯಸ್ವರೂಪವಾದ ಆತ್ಮ
ಪಶ್ಚಿಮ ವಾಯು (ಬೆ) : ಸುಷುಮ್ನನಾಳದಲ್ಲಿ ಸುಳಿಯುಡಿನ ಪ್ರಾಣವಾಯು
ಪಶ್ಚಿಮವಾಯುವಿನ ಕೊನೆಯ ಮೊನೆ (ಬೆ) : ಸಹಸ್ರದಳ ಕಮಲ
ಪಸರ : ಅಂಗಡಿ, ಪ್ರಸಾರ, ವಿಸ್ತಾರ
ಪಾಕುಳ : ಹೇಸಿಕೆ, ಮಲ
ಪಾಂಗು : ರೀತಿ
ಪಾತೆ : ಹೂ ಹಣ್ಣಿನ ಗಿಡಗಳಿಗೆ ಮಾಡುವ ಸುತ್ತು ಮಡಿ
ಪಾಯವಳಿ (ಬೆ) : ಸಕಲ ಕರಣಂಗಳು
ಪಾವಕ : ಬೆಂಕಿ
ಪಾಷಾಣ : ಕಲ್ಲು
ಪಿಂಡ (ಬೆ) : ಆಧಾರಶಕ್ತಿ
ಪಿಂಡತ್ರಯ : ನಾದ, ಬಿಂದು, ಕಳೆ
ಪಿಂಡಿಗೆ : ಪೀಟಿಕೆ, ಶಿವಲಿಂಗದ ಪಾಣಿ ಬಟ್ಟಲು
ಪಿರಿದೊಂದು ವೃಕ್ಷ (ಬೆ) : ಮಹಾಲಿಂಗ
ಪುನಶ್ಚರಣ ; ಪುರಶ್ಚರಣ : ಪುನಃ ಪುನಃ ಅನ್ನುವದು
ಪುರ (ಬೆ) : ದೇಹ
ಪೂತ : ಕೀವಾಗಿ ನಾರುವ, ತುಂಬಿದ
ಪೂರಾಯ : ಪೂರ್ಣ, ದೊಡ್ಡ
ಪೂಸು (ಹೂಸು) : ಹುಚ್ಚು, ಸವರು, ಬಳಿ
ಪೇಯ : ಕುಡಿಯಲು ಯೋಗ್ಯವಾದ ವಸ್ತು
ಪೃಥ್ವಿಕುಳ ಮಂಟಪ (ಬೆ) : ೧. ಪೃಥ್ವಿಯ ಅಂಶದಿಂದಾದ ದೇಹದೃಷ್ಟಿ ೨. ಪಂಚಭೂತಸಮ್ಮಿಶ್ರವಾದ ದೇಹ
ಪ್ರಣಿತೆ (ಪ್ರಣತಿ) (ಬೆ) : ತನುವೆಂಬ ಪ್ರಣಿತೆ
ಪ್ರತಿಷ್ಠೆ : ಸ್ಥಾಪನೆ, ನೆಲೆಸುವಿಕೆ
ಪ್ರಥಮ ಭಿತ್ತಿ (ಬೆ) :ಸ್ಥೂಲತನು, ಮಹಾ ಲಿಂಗ
ಪ್ರಥಮ ಭಿತ್ತಿಯ ಚಿತ್ರ (ಬೆ) :ಇಷ್ಟಲಿಂಗ
ಪ್ರಭಾವಿಸು : ಬೆಳಗಾಗು
ಪ್ರಮಾಣಿಸು : ಅಳೆ, ಒರೆಹಚ್ಚು, ತಿಳಿ
ಪ್ರಸಂಗ : ಸಂಭಾಷಣೆ, ಗೋಷ್ಠಿ, ಚರ್ಚೆ
ಪ್ರಾಣನಾಥ (ಬೆ) : ಆಧಾರಸ್ಥಾನದಲ್ಲಿರುವ ಚಿಲ್ಲಿಂಗ
ಪ್ರೇತಜನಾರಣ್ಯ : ಸ್ಮಶಾನ
ಪ್ರೌಢಿ : ಆಡಂಬರ
ಫಣಾ : ಹೆಡೆ
ಫಣಿ (ಬೆ) : ಕುಂಡಲಿನಿ ಸರ್ಪ

ಬ, ಭ

ಬಂಜೆಯ ಮಗ (ಬೆ) : ಅಜಾತವೆಂಬ ಶಿವತತ್ವ
ಬಂಡು : ಮಕರಂದ, ಜೇನು
ಬಿಂದುವಿನ ಕೊಡ (ಬೆ) : ಮನದ ಮುದ್ದೆಯಾದ ಕೊಡ
ಬಿಂದು ನಿಲ್ಲು : ಗರ್ಭಧರಿಸು
ಬೆಂಕಿಯ (ಬೆ) : ಜ್ಞಾನಾಗ್ನಿಸ್ವರೂಪವಾದ ಮಹಾಲಿಂಗ
ಬೆಂಗುಂಡು : ಹಡಗಿಗೆ ಹಾಕುವ ಲಂಗರ ಗುಂಡು
ಬೆಂಬಳಿವಿಡಿ : ಬೆನ್ನುಹತ್ತು
ಬಕ್ಕಟ : ಬರಿಯ
ಬಗದಳ : ಬಾಯಿಯಲ್ಲಾಗುವ ಒಂದು ಕೆಟ್ಟ ಹುಣ್ಣು
ಬಗರಿಗೆ : ತಪ್ಪಲೆ, ತಪ್ಪೇಲಿ. ಕೊಡ
ಬಗ್ಗುರಿ (ಸಂ. ವಾಗುರಿ) : ಮೃಗಗಳನ್ನು ಹಿಡಿಯಲು ಕಾಡಿನಲ್ಲಿ ಬೇಡರು ಬೀಸುವ ಬಲೆ

ಬಗೆಗೊಳಗಾಗು : ಆಲೋಚನೆಗೆ ನಿಲುಕು
ಬಡಿವಡೆ : ಹೊಡೆತವನ್ನು ಪಡೆ
ಬಣ್ಣ : ಸೀರೆ
ಬಣ್ಣ (ಬೆ) : ಪರಬ್ರಹ್ಮದ ಚಿದ್ಬೆಳಗು
ಬಣ್ಣಕ : ವರ್ಣನೆ ಮಾಡುವವ, ಹೊಗಳುವವ
ಬಣ್ಣದ ನುಡಿ (ಬೆ) : ಶಬ್ದಬ್ರಹ್ಮ
ಬಣ್ಣಗೆ : ಆತ್ಮಪೌರುಷ, ಬಣ್ಣದ ಮಾತು
ಬತ್ತೀಸ : ಮೂವತ್ತೆರಡು
ಬದ್ದಹೆನು : ಬದುಕುವೆನು, ಗಟ್ಟಿಯಾಗಿ, ನಿಲ್ಲುವೆನು
ಬಧಿರ : ಕಿವುಡ
ಬಯಕೆ (ಬಯ್ಕೆ) : ನೆಲದಲ್ಲಿ ಬಚ್ಚಿಟ್ಟ ನಿಧಿ
ಬಯಲಸಾಲಗೆ (ಬೆ) :ಪರಮಾಮೃತವೆಂಬ ಜಿಹ್ವೆ
ಬಯಲನೀರು (ಬೆ) : ಶಿವಧ್ಯಾನ
ಬಯಲು : ಶೂನ್ಯತತ್ವ, ವ್ಯರ್ಥ, ಹುಸಿ
ಬರು-ಬರಿ : ಬರಿಯ ವ್ಯರ್ಥ
ಬರುದೊರೆ : ಬತ್ತಿದ ಹೊಳೆ.ನದಿ– ಹಳ್ಳ
ಬರುದೊರೆವೋಗು : ದಣಿ, ವ್ಯರ್ಥ
ಬರುಮುಖರು : ತೋರಿಸಲು ಮುಖವಿಲ್ಲದವರು
ಬರುಸೂರೆವೋಗು : ಹಾಳಾಗು, ನಾಶವಾಗು
ಬರಿ : ಗಟ್ಟಿಯಾಗಿ ಕೂಡಿಸು, ಬಿಗಿಯಾಗಿ ಹಿಡಿ
ಬವರ : ಯುದ್ಧ
ಬವರಿಗೊಡು : ಸುತ್ತುಹಾಕು.ತಿರುಗಾಡು
ಬಳಗ (ಬೆ) : ಸಕಲ ಕರಣಂಗಳು
ಬಳ್ಳ (ಬೆ) : 'ಶಿವೋಹಂ' ಎಂಬ ಧ್ವನಿ
ಬಳ್ಳ : ಕಾಳು ಅಳೆಯುವ ಅಳತೆ
ಬಳ್ಳು : ನರಿ. ಮುದಿನರಿ
ಬ್ರಹ್ಮನ ಸಖಿ (ಬೆ) : ಸುಷುಮ್ನೆ

ಬಾಡು : ಬಾಡಿದ ಕಾಯಿಪಲ್ಲೆ, ಮಾಂಸ
ಬಾಣ (ಬೆ) : ೧. ಜ್ಞಾನ ೨. ಹಿಂಸೆ
ಬಾಣಸ : ಅಡಿಗೆ
ಬಾಣಸದ ಮನೆ (ಬೆ) : ಜ್ಞೇಯವೆಂಬ ನಿವಾಸ
ಬಾನ (ಬೋನ) : ಅನ್ನ
ಬಾಯತತ್ತು (ಬೆ) : ಪ್ರಾರಬ್ಧಾದಿ ಕರ್ಮಫಲ
ಬಾವಿ (ಬೆ) : ೧. ತನುವೆಂಬ ಕೂಪ ೨. ವಿಷಯಕೂಪ
ಬಾಹುದು : ಬರುವದು
ಬಾಳುದಲೆವಿಡಿ (ಬೆ) : ಸುಜ್ಞಾನಲಿಂಗವನ್ನು ಸದ್ಭಾವಹಸ್ತದಲ್ಲಿ ಧರಿಸು
ಬಾಳುದಲೆವಿಡಿ : ಜೀವಸಹಿತ ಸೆರೆಹಿಡಿ
ಬಾಳೆ (ಬಾಳೆ ಹೂ) (ಬೆ) : ೧. ಅಷ್ಟದಳ ಕಮಲ ೨. ವಿವೇಕವೆಂಬ ಕದಳಿ
ಬಿತ್ತು : ಬೀಜ
ಬಿನುಗು : ಕ್ಷುದ್ರ, ಕೀಳು, ದುಷ್ಟ
ಬಿಯ್ಯಗ : ಬೀಗ
ಬಿತ್ತದ ಬೆಳೆಯದ ತುಂಬಿದ ರಾಶಿ (ಬೆ) : ನಿಜಪದ ಸುಖದ ಸುಗ್ಗಿಯ ಬೆಳಸಿನ ರಾಶಿ
ಬಿಲಿ : ಕೊಳ್ಳು
ಬಿಲ್ಲು (ಬೆ) : ೧. ಮನಸ್ಸು, ೨. ಏಕನಿಷ್ಠೆ ೩. ಭಾವ
ಬಿಸುಗಣ್ : ಉರಿಗಣ್ಣು
ಬಿಸುಜಂತೆ :ಗಟ್ಟಿಯಾಗಿ ಕೂಡಿಸಿದ ಜಂತೆ
ಬಿಸುಜಂತೆ (ಬೆ) : ಸಕಲ ಕ್ರಿಯೆಗಳು
ಬೀಜ (ಬೆ) : ೧. ಮೂಲಾಹಂಕಾರ ೨. ಜನನಸ್ಥಲ
ಬೀಜವಿಲ್ಲದ ಅಕ್ಕಿ (ಬೆ) : ಸತ್ತೆಂಬ ತಂಡುಲ
ಬೀಜವಿಲ್ಲದ ಮರ (ಬೆ) : ಜನನಸ್ಥಲವಿಲ್ಲದ ಸ್ವಯಂಭು
ಬೀದಿ (ಬೆ) : ಲೌಕಿಕ

ಬೀದಿಗರುವಾಗು : ಬಯಲಿಗೆ ಬೀಳು. ಗೂಳಿಯಂತೆ ಸ್ವಚ್ಛಂದವಾಗಿ ತಿರುಗಾಡು
ಬೀದಿವರಿ : ಬೀದಿಯಲ್ಲಿ ಸ್ವತಂತ್ರವಾಗಿ ಓಡಾಡು
ಬೀಯ (ಸಂ. ವ್ಯಯ) : ವೆಚ್ಚ. ಉಪಯೋಗ
ಬೀಸರ : ನಾಶ . ಕೇಡು
ಬುದ್ಧಿಗೆಟ್ಟವ (ಬೆ) : ಅಭಿನ್ನವಿಚಾರ ಸಂಬಂಧಿ
ಬೂಟಕ : ಕಪಟ. ಅಸತ್ಯ
ಬೂಟಾಟಿಕೆ : ಜಂಬಕೊಚ್ಚಿಕೊಳ್ಳುವಿಕೆ
ಬೂದಿ (ಬೆ) : ೧. ಮಹದೈಶ್ವರ್ಯ ೨. ಚಿದ್ಭಸ್ಮ
ಬೆಕ್ಕು (ಬೆ) : ೧. ಮಾಯಾಮಂಜಿರ ೨. ತನ್ನ ನಿಲವ ಗ್ರಹಿಸಿ ಹಿಡಿವೆನೆಂಬ ತದೇಕಾಗ್ರ ಚಿತ್ತ ೩. ಪರಿಪೂರ್ಣ ಜ್ಞಾನ (ರಾತ್ರಿಯಲ್ಲಿ ಕಾಂಬುದಾಗಿ) ಮಾಯೆಯೆಂಬ ಮಾರ್ಜಾಲ
ಬೆಚ್ಚ : ಬೆಸೆದ. ಬಸುಗೆ ಹಾಕಿದ
ಬೆಟ್ಟ (ಬೆ) : ಅಹಂಕಾರವೆಂಬ ಗಿರಿ
ಬೆಡಗಿನ ಕೀಲ : ಪರತತ್ವದ ಬಗೆಗಿನ ರಹಸ್ಯ
ಬೆಡಗು : ರಹಸ್ಯ. ಸೌಂದರ್ಯ. ಅರ್ಥಾಂತರತೆ
ಬೆಣೆ (ಬೆ) : ೧. ಪರಿಪೂರ್ಣ ಶಿವತತ್ವ. ಶಿವಾನುಭವ ೨. ಪರಿಪೂರ್ಣ ವಿವೇಕ
ಬೆದಕು : ಹುಡುಕು
ಬೆರಣೆ : ಕುಳ್ಳು
ಬೆರಸು : ಕೂಡು. ಸಂಗಮಾಡು
ಬೆರಳು (ಬೆ) : ಲಕ್ಷ್ಯಾಲಕ್ಷಣಗಳು
ಬೆರೆ : ಅಹಂಕರಿಸು
ಬೆಸನ ಮಾಡು : ಅಪ್ಪಣೆಕೊಡು. ಅಪ್ಪಣೆ ಪಾಲಿಸು
ಬೆಸಲಾಗು : ಹಡೆ
ಬೆಸಸು : ಹೇಳು. ಆಜ್ಞೆಮಾಡು. ವಿಚಾರಿಸು
ಬೆಳಸು (ಬೆ) : ಧರ್ಮ ಕರ್ಮಂಗಳು
ಬೆಳ್ಳಕ್ಕಿ (ಬೆ) : ಪರಮಹಂಸ ತತ್ವ
ಬೆಳ್ಳಾರ (ಬೆ) : ಕರ್ಮಭಕ್ತಿ ಜ್ಞಾನವೆಂಬ ಬಲೆ
ಬೆಳ್ಳಾರ : ಬಲೆ. ಜಾಲ. ಪಾಶ
ಬೇಟ : ಪ್ರೇಮ. ಕಾಮ. ವಿರಹ
ಬೇರಿನೊಳಗಿನ ಹಣ್ಣು (ಬೆ) : ಮೂಲಜ್ಞಾನವೆಂಬ ಫಲ
ಬೇರಿಲ್ಲದ ಗಿಡ (ಬೆ) : ಚಿತ್ಪಿಂಡವೆಂಬ ವೃಕ್ಷ. ವಿವೇಕ ವೃಕ್ಷ
ಬೇರು (ಬೆ) : ಮೂಲಾಹಂಕಾರ
ಬೇರೆನಿಸಿದ ಬಾಣ (ಬೆ) : ಏಕೋನಿಷ್ಠೆ
ಬೇಹು : ಗೂಢಚರ್ಯ. ಕಾವಲು. ಹೊಂಚಿಕೆ
ಬೇಳುವ : ತೊಂದರೆ. ಭ್ರಾಂತಿ. ಕೃತ್ರಿಮವಾಗಿ ನಂಬಿಸಿ ಮಾತಾಡುವಿಕೆ
ಬೊಬ್ಬೆಯಬ್ಬರ (ಬೆ) : 'ಶಿವೋಹಂ ಶಿವೋಹಂ' ಘೋಷಣೆ
ಬೋನ (ಬೆ) : ಆತ್ಮತತ್ವ
ಬೈಗು : ಮುಚ್ಚಂಜೆ
ಬೈಚಿಡು : ಮುಚ್ಚಿಡು
ಭಂಡ : ಸರಕು ಸಾಮಗ್ರಿ. ನಿರ್ಲಜ್ಜ
ಭದ್ರ (ಬೆ) : ಮಂಗಳಸ್ವರೂಪಿಣಿಯಾದ ಚಿತ್‌ಶಕ್ತಿ
ಭರ : ತವಕ. ಉತ್ಸಾಹ
ಭಾನು : ಪಿಂಗಳನಾಡಿ. ಸೂರ್ಯನಾಡಿ
ಭಿತ್ತಿ : ಗೋಡೆ
ಭಿತ್ತಿಮೂರು (ಬೆ) : ಸ್ಥೂಲ ಸೂಕ್ಷ್ಮ ಕಾರಣ ತನುಗಳು
ಭೂಭೂಕಾರ : ತುಂಬಾ ಅಬ್ಬರದ ವೃತ್ತಿ?
ಭುವನದ ಹದಿನಾಲ್ಕರ ಭವನ (ಬೆ) : ಚತುರ್ದಶ ಇಂದ್ರಿಯಗಳಿಂದ ಕೂಡಿದ ಪಿಂಡಾಂಡ
ಭೂವರ್ಲೋಕ (ಬೆ) : ಆಧಾರಸ್ಥಾನ
ಭೂಭೂಕಾರ (ಬೆ) : ಅಬ್ಬರದ ವೃತ್ತಿ

ಭೂಭೂಕಾರ (ಬೆ) : ಅಬ್ಬರದ ವೃತ್ತಿ ಜ್ಞಾನದ ಪ್ರಭೆ
ಭೇದಕ : ಮರ್ಮ ತಿಳಿಯುವವ
ಭೇದಗೆಡು : ಒಂದಾಗು
ಭೈತ್ರ : ಹಡಗು
ಭೋಗವ ಕೊಡು : ಆಶ್ರಯ ನೀಡು

ಮ

ಮಂಜರ (ಬೆ) : ಬೆಕ್ಕು
ಮಂಜರನೇತ್ರ (ಬೆ) (ಬೆಕ್ಕಿನ ಕಣ್ಣು) : ಜ್ಞಾನಾರ್ಥ ನಿರ್ಭರದ ನೋಟ
ಮಂಡೆ : ತಲೆ
ಮಂದರಗಿರಿ (ಬೆ) : ಚಿದಹಂಕಾರ ಗಿರಿಯೆನಿಪ ತ್ರಿಕೂಟ
ಮಚ್ಚು : ಮೆಚ್ಚಿಕೆ, ಆಸಕ್ತಿ, ಆಸೆ
ಮಠ (ಬೆ) : ಶಿವಯೋಗಿಯ ಪಿಂಡ
ಮಡಗು : ಅಡಗಿಸು, ಬೈಚಿಡು
ಮಡದಿ (ಬೆ) : ಕ್ರಿಯಾಶಕ್ತಿ
ಮಣಿಹ : ಕರ್ತವ್ಯ, ಉದ್ದೇಶ
ಮಣ್ಣಿಲ್ಲದ ಹಾಳು (ಬೆ) : ದೇಹಧರ್ಮ ವಳಿದು ನಿಜ ಉಳಿದ ನಿರ್ವಯಲು
ಮಥನಲೀಲೆ : ವಾಗ್ವಾದ
ಮದಾಳಿ : ಮದಿಸಿದ ದುಂಬಿ
ಮಂದು : ಗುಡಿಯಿಲ್ಲದ ಚಿಕ್ಕಹಳ್ಳಿ? ಚೌಕ, ತೋಟದ ನಡುಭಾಗ
ಮದುವಣಿಗ (ಬೆ) : ೧. ಶರಣ, ೨. ಮಹಾಲಿಂಗ, ೩. ಲಿಂಗಭಾವ
ಮನದ ಬಣ್ಣ (ಬೆ) : ಪ್ರಪಂಚದ ಭಾವನೆಗಳು
ಮನೆ (ಬೆ) : ೧. ಪಿಂಡ, ಮಾಯಾಪಿಂಡ ೨. ಅಂತರಂಗದ ಜ್ಞಾನಸ್ಥಲ
ಮನೆಯ ಕಟ್ಟು (ಬೆ) : ದೇಹ ಧರಿಸು
ಮನೆಯೊಡನೆಯ (ಬೆ) : ಜೀವಾತ್ಮ
ಮರ (ಮಾಮರ) (ಬೆ) : ವಿವೇಕ ವೃಕ್ಷ
ಮರವಡದ ಕುಳಿ : ಇನ್ನೂ ಗಿಡ ನಾಟಿಸದ ತಗ್ಗು
ಮರಿ (ಬೆ) : ಕರಣೇಂದ್ರಿಯ
ಮರೀಚಿ (ಮರೀಚಿಕೆ)(ಬೆ) : ಬಿಸಿಲುಗುದುರೆ
ಮರುಳು : ಭೂತ, ಪಿಶಾಚಿ, ಹುಚ್ಚ
ಮರುಳುಂಡ : ದೆವ್ವಬಡಿದ
ಮರುಜ(ಜೇ)ವಣಿ : ಸಂಜೀವಿನಿ
ಮಹತ್ತು : ಮಹಾತತ್ವ
ಮಹಳ (ಮಾಳ) : ಸತ್ತದಿನಾಚರಣೆ, ಶ್ರಾದ್ಧ
ಮಾಟ : ಕ್ರಿಯೆ, ಆಚರಣೆ
ಮಾಡ : ಸಿದಿಗೆ, ವಿಮಾನ
ಮಾಣ್ : ಬಿಡು, ವಾಸಿಯಾಗು
ಮಾನ : ಕಾಳು ಅಳೆವ ಮಾಪನ, ಅರ್ಧ ಸೇರು
ಮಾನಿಸಮಕ್ಕಳು : ಗಂಡುಮಕ್ಕಳು
ಮಾಯದ : ಮಿಥ್ಯವಾದ, ವೃಥಾ
ಮಾರಡೆ : ಮಾಯೆ, ಆಧಾರ, ಹಂಗು
ಮಿಟ್ಟಿ : ಮಣ್ಣು
ಮಿಳಿ : ಮಿಣಿ
ಮೀ (ಮೀಯು) : ಸ್ನಾನಮಾಡು
ಮೀನಕೇತನ : ಕಾಮದೇವ
ಮೀಹ : ಸ್ನಾನ, ಜಳಕ
ಮುಂಡಧಾರಿ (ಬೆ) : ಅಜ್ಞಾನ ಪ್ರಪಂಚ ಧರಿಸಿದವ
ಮುಂಡೆಯಾಗು (ಬೆ) : ಸತಿಪತಿಭಾವ ನಿಷ್ಪತ್ತಿಯಾಗು
ಮುಂದಣಕೇರಿಯ ಮೊಲ (ಬೆ) : 'ಪ್ರಾಜ್ಞ' ಎಂಬ ಜೀವ
ಮುಖ : ಭ್ರೂಮಧ್ಯ, ಆಜ್ಞಾಚಕ್ರ
ಮುಗಿಲಗಲದ ಮೇಲುಕಟ್ಟು (ಬೆ) : ಮಹದಾಕಾಶ
ಮುಗಿಲಬಣ್ಣದ ಪಕ್ಷಿ (ಬೆ) : ಜೀವಹಂಸ

ಮುಗಿಲು (ಬೆ) : ೧. ಮಿಥ್ಯೆ ೨. ಮಾಯೆ
ಮುತ್ತು : ಮುಪ್ಪಾಗಿ
ಮುತ್ತು (ಬೆ) : ಮುಕ್ತಿ
ಮುದ್ರು : ಮುಸುಕು, ಮುಚ್ಚಳ
ಮುಯ್ಯಾನು : ಹೆಗಲುಕೊಡು, ಮರೆಸು
ಮುರಿ ಸೋಲು, ಸೋಲಿಸು, ಹಿಮ್ಮೆಟ್ಟು
ಮೂಕೊರತಿ : ಮೂಗು ಕೊಯ್ಸಿಕೊಂಡವಳು
ಮೂರನೆಯ ಭಿತ್ತಿ (ಬೆ) : ಕಾರಣತನು
ಮೂರನೆಯ ಭಿತ್ತಿಯ ಚಿತ್ರ (ಬೆ) : ತೃಪ್ತಿ (ಭಾವ)ಲಿಂಗ
ಮೂರು ಗಿರಿ (ಬೆ) : ಸತ್ವ, ರಜ, ತಮವೆಂಬ ಗುಣತ್ರಯಗಳು
ಮೂರು ತತ್ತಿ (ಬೆ) : ಶರೀರತ್ರಯ
ಮೂರುದಿನ (ಬೆ) : ಜ್ಞಾತೃ, ಜ್ಞಾನ, ಜ್ಞೇಯವೆಂಬ ತ್ರಿಸೋಪಾನ
ಮೂರುಬಟ್ಟೆ (ಬೆ) : ಜೀವತ್ರಯ
ಮೂರುಬಟ್ಟೆ (ಬೆ) : ಕರ್ಮ, ಜ್ಞಾನ, ಭಕ್ತಿ ಮಾರ್ಗಗಳು
ಮೂರು ಬಾವಿಗಳು (ಬೆ) : ಜೀವಾತ್ಮ ಅಂತರಾತ್ಮ ಪರಮಾತ್ಮ ಎಂಬ ವಿವಿಧ ಆತ್ಮ ಭಾವನೆಗಳು
ಮೂರು ಬೀದಿ (ಬೆ) : ಭೂತ ವರ್ತಮಾನ ಭವಿಷತ್‌ಕಾಲಗಳು
ಮೂವರು ಮಕ್ಕಳು (ಬೆ) : ಜೀವತ್ರಯ
ಮೆಲ್ : ತಿನ್ನು
ಮೆಳೆ : ಪೊದೆ, ಕಂಟಿ
ಮೇಘವಹ್ನಿ : ಸಿಡಿಲು
ಮೇಣ (ಬೆ) : ನಿರಹಂಭಾವ
ಮೇರು (ಬೆ) : i. ಮೂಲಹಂಕಾರ i. ಚಿದಹಂಕಾರ iii. ಅಹಂಕಾರ iv. ಶಿವೋಹಂ ಭಾವ
ಮೇಲು : ರಹಸ್ಯ, ಮೂಲಭೇದ
ಮೇಲುದಾಯದಲೊಬ್ಬ ಸತಿ (ಬೆ) : ಪರಾಶಕ್ತಿ
ಮೇಲುವೋ(ಹೊ)ದಕೆ (ಬೆ) : ಆಚಾರ
ಮೇಳಾಪ : ಕೂಡುವಿಕೆ ; ಸ್ನೇಹ, ಸಹವಾಸ
ಮೊಗೆ : ತೆಗೆ, ತುಂಬು
ಮೊಗವ ತೊಳೆ (ಬೆ) :ರೇಚಕವನಾಚರಿಸು
ಮೊಟ್ಟೆ : ಗಂಟು
ಮೊದಲು : ಅಸಲುಗಂಟು, ಮೂಲಧನ
ಮೊರೆ : ಧ್ವನಿಗೆಯ್, ಆಶ್ರಯ
ಮೊಲ (ಬೆ) : ಜೀವಾತ್ಮ
ಮೊಲೆ ನೀರ (ಬೆ) : ತಾಯಿಯ ಎದೆ ಹಾಲು
ಮೊಲೆ ನೀರ ಮೀ : ಮಕ್ಕಳನ್ನು ಹಡೆದು ಮೊಲೆಯಲ್ಲಿ ಹಾಲು ತುಂಬು
ಮೊಲೆಯಿಲ್ಲದ ಆವು (ಬೆ) : ಅಮೃತಬಿಂದುವೆಂಬ ಕಾಮಧೇನು
ಮೊಳೆ (ಬೆ) : ಶಿವಾನುಭಾವದ ವಿವೇಕದ ಅಂಕುರ
ಮೊಳೆದೋರು : ಮೊಳಕೆಯೊಡೆ
ಮೋಟ : ಮೊಂಡ ಕೈಯವ, ಅಜ್ಞಾನಿ
ಮೌಕ್ತಿಕ : ಮುತ್ತು
ಮೃಗ (ಬೆ) : i. ಜೀವ ii.ಮಾಯಾಮೃಗ

ಯ

ಯಂತ್ರವಾಹಕ : ಯಂತ್ರನಡೆಸುವವ, ಪರಶಿವ
ಯ (ಬೆ) : ಜ್ಞಾನ
ಯೂಥ : ಸಮೂಹ
ಯೋಗವಟ್ಟಿಗೆ : ಯೋಗಪಟ್ಟಿಕೆ

ರ

ರಂಜನೆಯ ಭಂಡ (ಬೆ) : ಬಹುವರ್ಣ ಕರ್ಮಗಳೆಂಬ ಸುಯಿಧಾನ ಪರಿಕರ
ರಂಭೆ (ಬೆ) : ಜ್ಞಾನಶಕ್ತಿಯ ಪ್ರತೀಕ

ರಕ್ಕಸಿಯ ಮನೆ (ಬೆ) : ಪಂಚಭೂತಾತ್ಮಕ ಶರೀರ
ರಗಟೆ : ಚಿಂದಿ, ಬಟ್ಟೆಯ ತುಂಡು
ರಚ್ಚೆ : ನಿಂದ್ಯವಾದ ಮಾತು, ಬಡಬಡಿಕೆ
ರಜ : ಕಸ, ಹೊಲಸು, ಧೂಳಿ
ರಜ (ಬೆ) : ಪಿಂಡ
ರಜತಗಿರಿ : ಬೆಳ್ಳಿಯ ಬೆಟ್ಟ
ರಜತ–ಹೇಮಗಿರಿ (ಬೆ) : ಸಾತ್ವಿಕ, ರಾಜಸ ಅಹಂಕಾರಗಳು
ರಣ (ಬೆ) : ಲಯಕಾರ
ರಣವುಂಡ ಭೂಮಿ (ಬೆ) : ಎಲ್ಲ ಭೂತೇಂದ್ರಿಯಗಳನ್ನು ಆಳಿಕೊಂಡಿರುವ ಪಿಂಡ, ದೇಹಭಾವ
ರತುನ (ಬೆ) : ಸ್ವರೂಪಜ್ಞಾನರತ್ನ
ರಥ (ಬೆ) : i. ಶಿವಭಕ್ತಿ ii. ದೇಹ
ರಥದ ಅಚ್ಚು (ಬೆ) : ದೃಢನಿಶ್ಚಯ
ರಥದ ಕೀಲು (ಬೆ) : ದೇಹವು ನಿರ್ವಯಲಾಗುವ ರಹಸ್ಯ, ಪ್ರಾಣವಾಯು
ರವಿ (ಬೆ) : i. ಮಹಾಜ್ಞಾನಶಕ್ತಿ ii. ಸುಜ್ಞಾನ
ರವಿಯ ರಥ (ಬೆ) : ಸುಜ್ಞಾನ ಸಾಧನವಾದ ಶಿವಭಕ್ತಿ
ರಶ್ಮಿ : ಕಿರಣ
ರಸ (ಬೆ) : ಪರಮಾನಂದ ಜಲ, ಲಿಂಗರಸ
ರಸದ ಬಾವಿ (ಬೆ) : i. ತಮ್ಮೃತ ಕುಂಭ ii. ಶಿವಯೋಗಿಯ ಮನ
ರಾಶಿವಾಳ : ಜೀವರಾಶಿಯ ಸಂರಕ್ಷಕ
ರುದ್ರ (ಬೆ) : i. ತಮೋಗುಣ ಸಂಬಂಧವಾದ ರುದ್ರತತ್ವ ii. ಶಿವಾಹಂಕಾರ iii. ಕಾರಣತನು
ರುದ್ರ ಭೂಮಿ (ಬೆ) : ಅಂಗ
ರುದ್ರ ಯೋನಿ (ಬೆ) : ನಿಜದ ಸುಷುಪ್ತಿಯ ಸ್ಥಾನ
ರೂಹಿಲ್ಲದ ತಲೆ (ಬೆ) : ನಿರವಯಜ್ಞಾನ
ರೋಮಕೂಪ : ಕೂದಲಿನ ಬೇರು

ಲ

ಲಗುನ ಮಿಗುನ : ಲಗ್ನ ವಿಘ್ನ
ಲಘು : ಕೀಳು, ಕನಿಷ್ಠ
ಲಚ್ಚಣ : ಲಕ್ಷಣ, ಲಾಂಛನ, ಗುರುತು
ಲಂದಣಿಗ : ಅಡಿಗೆಯವ
ಲಾಕುಳ : ಸನ್ಯಾಸಿ ಕೈಯಲ್ಲಿ ಧರಿಸುವ ದಂಡ
ಲಾಂಛನ : ವೇಷ
ಲೀಯವಹ : ಅಡಗುವ
ಲೆಂಕ : ಸೇವಕ, ದಾಸ
ಲೆಪ್ಪ : ಲೇಪಿಸುವುದು, ಹಚ್ಚುವುದು
ಲೋಯಿಸರ : ಲೋಳಸರ

ವ

ವ : ೧. ವಾಯು ೨. ಪರಮಹಂಸ
ವಜ್ರ : ೧. ಶಿವತತ್ವ ೨. ಅಭೇದ್ಯಜ್ಞಾನ ಶಕ್ತಿ
ವಜ್ರಯೋಗಿ (ಬೆ) : ಶಿವಯೋಗಿ
ವರಮುಖಿಯಾಗು : ವರವನ್ನು ಬೇಡು
ವರ್ಣಕ : ಹಾಡುಗಬ್ಬ
ವರ್ಮ : ಯುಕ್ತಿ, ಯುದ್ಧ ಕವಚ
ವಸುಧಾಜಾತ : ಗಿಡ
ವಸುಧೆ (ಬೆ) : ಪೃಥ್ವಿತತ್ವಾಂಶವಾದ ಕಾಯ
ವಸುಧೆಯಾಕೃತಿ (ಬೆ) : ಜೀವನಮಿಥ್ಯಾ ಪಿಂಡ
ವಸ್ತುಕ : ಚಂಪೂಕಾವ್ಯ
ವಾಕು : ಮಾತು
ವಾಮಭಾಗ (ಬೆ) : ಚಿತ್‌ಶಕ್ತಿ
ವಾಯ : ವೃಥಾ, ಶೂನ್ಯ, ಮೋಸ, ಹಟ?

ವಾಯು ಅನಲನಸಂಚ (ಬೆ) : ಅಗ್ನಿ ವಾಯುಗಳೆರಡರ ಕೂಟ – ತನುವಿಗೆ ಇದೇ ಆಧಾರ

ವಾರಿಕಲ್ಲು : ಆಲಿಕಲ್ಲು, ಆಣೆಕಲ್ಲು

ವಾರಿಧಿ (ಬೆ) : ಅನುಭವವೆಂಬ ಸಮುದ್ರ

ವಾಸುದೇವ (ಬೆ) : ಪರಶಿವ

ವಾಳಾವಳಿ : ಆಡಂಬರ, ಮನಸ್ಸಿನ ಉದ್ವೇಗ

ವಿಗಡ : ವೀರ, ಭವ್ಯ, ಸುಂದರ

ವಿಗುರ್ಬಣೆ : ಅಂಜಿಕೆಯುಂಟುಮಾಡುವ ವಸ್ತು, ಸಂಗತಿ

ವಿದ್ರುಮ : ಹವಳ

ವಿದ್ರುಮ (ಬೆ) : ಪ್ರಾಣಲಿಂಗದ ಕುರುಹು

ವಿಭ್ರಾಂತಿ : ಭ್ರಾಂತಿಯಿಲ್ಲದುದು

ವಿಭೂತಿ (ಬೆ) : ಚಿಚ್ಛಕ್ತಿಗೆ ಮೂಲವಾದ ಚಿದ್ವಿಭೂತಿ

ವಿಮಾನ : ಹೆಣ ಒಯ್ಯುವ ಮಂಟಪ, ಸಿದಿಗೆ

ವಿಮಾನ ಹೊರು (ಬೆ) : ಲಿಂಗೈಕ್ಯದಲ್ಲಿ ವಿಶ್ರಾಂತಿ ಪಡೆ

ವಿರಿಂಚಿ : ಬ್ರಹ್ಮ

ವಿಸಂಚ : ಚಾಂಚಲ್ಯ, ದ್ರೋಹ

ವಿಷ್ಣು (ಬೆ) : i. ಸಾತ್ವಿಕಗುಣಸಂಬಂಧ ವಿಷ್ಣು ತತ್ವ, ii. ಸತ್ವಗುಣದ ಸ್ಥಿತಿ, iii. ಆದಿಶಕ್ತಿಯ ಪ್ರತೀಕ iv. ಸೂಕ್ಷ್ಮದೇಹ

ವಿಹಂಗ : ಪಕ್ಷಿ

ವೆಜ್ಜ : ರಂಧ್ರ, ತೂತು

ವೇದಪುರ (ಬೆ) : ನಾದವೆಂಬ ಪಿಂಡ

ವೇಧಿಸು : ಭೇದಿಸು, ನಾಟು, ತಾಕು

ವೈಭೋಗ : ವೈಭವವನ್ನು ಅನುಭವಿಸುವಿಕೆ

ವೃಕ್ಷವಿಲ್ಲದ ದಳ (ಬೆ) : ದೇಹಭಾವವಿಲ್ಲದ ನಿರ್ದೇಹ

ವೃಷಭ (ಬೆ) : ಭಕ್ತಿಯೆಂಬ ಸುರಧೇನು

ವೃಷಭ ಮುಟ್ಟದ ಹಯನು (ಬೆ) : ಶಿವಭಕ್ತಿ ಸಂಗರಹಿತವಾಗಿರುವ ಭಕ್ತಿಯೆಂಬ ಸುರ ಧೇನುವಿನಿಂದಾದ ವಿವೇಕವೆಂಬ ನವನೀತ

ವ್ಯವಹರಣೆ : ಎಡೆಯಾಟ

ವ್ಯ(ಬೆ)ವಹಾರಿ : ಜೀವ

ವ್ಯಾಧ (ಬೆ) : ಕಾಮನೆಂಬ ಬೇಟೆಗಾರ, ಶರಣ

ಶ

ಶಶಿ (ಬೆ) : ಇಡಾನಾಡಿ, ಚಂದ್ರನಾಡಿ

ಶಶಿವದನೆ (ಬೆ) : ಚಿತ್‌ಶಕ್ತಿ

ಶಶಿವಂಶ (ಬೆ) : ಪರಮಶಾಂತಿ

ಶಾಖಪಾಕ : ನಂಜಿಕೊಳ್ಳುವ ಮತ್ತು ಉಣ್ಣುವ ಪದಾರ್ಥ

ಶಾಖೆ (ಬೆ) : ಅನಾತ್ಮ ತತ್ವವಾಸನೆ

ಶಿ (ಬೆ) : ರುದ್ರ

ಶಿಖರಿ : ಶಿಖರವುಳ್ಳದ್ದು, ಪರ್ವತ

ಶಿಖಾಗ್ರ (ಬೆ) : ಬ್ರಹ್ಮರಂಧ್ರದ ತೂರ್ಯ ಸ್ಥಾನ

ಶಿತಾಳ (ಶೀತಾಳ, ಸೀತಾಳ) : ತಣ್ಣನೆಯ ನೀರು

ಶಿವದಾನ : ಮಜ್ಜಿಗೆ

ಶಿವದಾರ (ಬೆ) : ಅನುಭಾವ ಸ್ವಾನುಭಾವ ಸೂತ್ರ

ಶಿವಾಲಯ (ದೇಗುಲ) (ಬೆ) : ಚಿತ್ಪಿಂಡ

ಶಿಶು : ಶಿಷ್ಯ, ಬಾಲಕ

ಶಿಶು (ಬೆ) : ಜೀವ, ಚಿಲ್ಲಿಂಗ, ಶರಣ

ಶೂನ್ಯ – ನಿಶ್ಶೂನ್ಯ (ಬೆ) : ಜೀವ-ಪರಮರು

ಶೂಲ (ಬೆ) : ಶಿವಜ್ಞಾನ

ಶ್ರವ (ಸಂ. ಶ್ರಮ) : ಸಾಧನೆ, ಅಭ್ಯಾಸ

ಶ್ರಾವಕ : ಜೈನಗೃಹಸ್ಥ

ಶ್ರೀಶೈಲದ ಉದಕ (ಬೆ) : ಬ್ರಹ್ಮರಂಧ್ರದಲ್ಲಿರುವ ಪರಮಾಮೃತ

ಶ್ಲೇಷ : ಕಫ
ಸ
ಸಂಕಲೆ (ಶೃಂಖಲೆ) : ಬಂಧನ, ಬೇಡಿ
ಸಂಚ : ರಹಸ್ಯ, ಸಂಚಯ, ಗುಂಪು, ಕೂಟ, ಸಂಬಂಧ
ಸಂಚ : ನಿರ್ವಹಣೆ, ಆಯ, ವ್ಯವಸ್ಥೆ
ಸಂಚಹ ತಲೆ (ಬೆ) : ಸುಜ್ಞಾನ
ಸಂಚದ ನೋಟ (ಬೆ) : ಮೂಲ ಜ್ಞಾನ ದೃಷ್ಟಿ
ಸಂಜೀವಿನಿಯ ಬೇರು (ಬೆ) :ಮೂಲಜ್ಞಾನ
ಸಂತ (ಸಂ. ಶಾಂತ) : ಸರಿ, ಒಪ್ಪಿಗೆ
ಸಂದ : ಪ್ರಸಿದ್ಧ, ಹೊಂದಿದ, ಮರಣಿಸಿದ
ಸಂದಣಿ : ಗುಂಪು, ಹೊಂದಿಕೆ, ಸಡಗರ
ಸಂದಳಿ (ಸಂದು + ಅಳಿ) :ಸಂದಿಲ್ಲವಾಗು. ಒಂದಾಗು
ಸಂದಿಕ್ಕು : ಹುರಿಮಾಡು
ಸಂದಿರು : ಕೂಡಿರು
ಸಂದಿಲ್ಲದ ಕಾಲು (ಬೆ), ಸದಾಚಾರ ವರ್ತನೆ
ಸಂದು : ಬಿರುಕು. ಭೇದ, ಛಿದ್ರ
ಸಂದು ಹೋಗು : ಸಾಯು
ಸಂಪುಟ : ಮುಚ್ಚಳವುಳ್ಳ ಪೆಟ್ಟಿಗೆ, ಮೇಳ
ಸಂಬಳ ಗುಂಡು : ಪ್ರಯಾಣಕಾಲದ ಸಾಮಗ್ರಿಯ ಗಂಟು
ಸಕೀಲ : ಮರ್ಮ. ರಹಸ್ಯ, ಕೀಲದಿಂದ ಕೂಡಿದ್ದು
ಸಕುತಿ : ಅಸಕ್ತಿ
ಸತ್ತಿಗೆ (ಸಂ. ಛಿತ್ರಿಕಾ): ಕೊಡೆ
ಸತ್ತಕೋಳಿ ಎದ್ದು ಕೂಗು (ಬೆ) : ಪ್ರಣವ ನಾದ ಹೊರಹೊಮ್ಮು
ಸತ್ತಮೃಗ : ದೇಹಭಾವವಳಿದು ಶಿವಭಾವ ಪಡೆದ ಜೀವ
ಸತ್ಯಲೋಕದ ಅಗ್ಗವಣಿ (ಬೆ) : ಬ್ರಹ್ಮ ರಂಧ್ರದ ಅಮೃತರಸ
ಸದಮದಗಜ : ಮದವೇರಿದ ಆನೆ
ಸನ್ನಹಿತವಾಗು: ಕೂಡಿಕೊಂಡಿರು
ಸನಿಯನ್ನ : ಶನಿಯಂತಹ
ಸನುಮತ : ಸಮ್ಮತ, ಸಿದ್ಧಾಂತ
ಸಬ (ಸಂ. ಶವ) : ಹೆಣ
ಸಬ (ಬೆ) : ಸತ್, ಸತ್ತ
ಸಮಯ : ಒಂದು ಮತವನ್ನು ಪರಿಪಾಲಿಸುವ ಜನರ ಗುಂಪು, ಪಂಗಡ, ಧರ್ಮ
ಸಮವೇಧಿಸು : ಸಮರಸವಾಗು. ಕೂಡು
ಸಮೆ : ಸವೆಸು, ತೇಯು
ಸಯ : ಸ್ವಯಂ, ಸಮ, ನಿತ್ಯವಾದುದು
ಸಯ (ಬೆ) : ನಿತ್ಯವಾದ ಪರಬ್ರಹ್ಮ
ಸಯದಾನ (ಬೆ) : ಪರಮಾನಂದ ಪರಮಾರ್ಥ
ಸಯ(ಯಿ)ದಾನ : ಪಾಕ ಪದಾರ್ಥ, ನೈವೇದ್ಯ ವಸ್ತು
ಸಯಿಧಾನ (ಬೆ) : ಸಂಸ್ಕಾರ
ಸರ : ಸ್ವರ. ಉಸಿರು, ಬಾಣ, ಓಂಕಾರ
ಸರ, ಸ್ವರ (ಬೆ) : ಪ್ರಣವ (ಘೋಷ)
ಸರಿದೊಡಕು : ಬಗೆಹರಿಯದ ತೊಂದರೆ
ಸರ್ಪ (ಬೆ) : ೧. ಅಧಃ ಕುಂಡಲಿನಿ. ಮನಸ್ಸು ೨. ಶಿವಯೋಗಿಯ ಸಗುಣ ಬ್ರಹ್ಮದ ಮೂಲಕುಂಡಲಿ
ಸರ್ಪನ ಹೇಳಿಕೆ (ಬೆ) : ಆಧಾರಚಕ್ರ
ಸರ್ಪಿಣಿ (ಬೆ) : ಆಧಾರಶಕ್ತಿ
ಸರೋವರ (ಬೆ) : ಅಮೃತಸಾಗರ, ಮನಸ್ಸು
ಸಲ್ಲು : ಬಳಕೆಗೆ ಬರು
ಸಸಿ (ಬೆ) : ಕಾಮವಿಕಾರ
ಸಸಿನ : ಕ್ಷೇಮ. ಲೇಸು
ಸಾರಕ್ಕೆ : ಸಮೀಪಕ್ಕೆ
ಸಾರಾಯ : ಸಾರ. ತಿರುಳು. ತತ್ವ, ಉತ್ತಮಾಂಶ
ಸಾಹಿತ್ಯ : ಸಂಬಂಧ
ಸಂಗಿ : 'ಶೃಂಗಿ' ಎಂಬ ವಿಷದ ಜಂತು

ಸಿಂಹ (ಬೆ) : ನಿರಹಂಕಾರ, ಸುಜ್ಞಾನ
ಸಿಡಿಲ ಬಣ್ಣ (ಬೆ) : ಪರಾಶಕ್ತಿಯ ಆವರಣ
ಸಿಡಿಲು (ಬೆ) : ಮಹಾಜ್ಞಾನಾಗ್ನಿ
ಸಿತ : ಬಿಳಿದು, ಕರ್ಪೂರ
ಸಿನೆ : ಶೂನ್ಯ
ಸಿರಿ ಶೈಲ (ಬೆ) : ಬ್ರಹ್ಮರಂಧ್ರ
ಸೀರೆ (ಬೆ) : ಕರ್ಮಪಾಶ
ಸುತ್ತಲಿಲ್ಲದ ವ್ಯಾಧ (ಬೆ) : ಭ್ರಾಂತವ್ಯಾಪಾರ ಅಳಿದ ಶರಣ
ಸುಪ್ಪಾಣಿ : ಶುಭ್ರವಾದ ಮುತ್ತು, ಆಭರಣ ವಿಶೇಷ
ಸುಮ್ಮಾನ (ಸುಮಾನ, ಸುಮನ) : ಸುಖ, ಆನಂದಿತ ಮನ
ಸುಯಿಧಾನ : ಪರಿಕರ, ಸಾಮಗ್ರಿ, ಶುದ್ಧಾಹಾರ, ಸುವಿಧಾನ
ಸುರಪತಿಯ ಗಜ (ಬೆ) : 'ಸೋಹಂ' ಎಂಬ ಗಜ
ಸುರಾಳ (ಬೆ) : ಸಾಕಾರ, ಸಗುಣ, ಸಕಲ
ಸುವರ್ಣ (ಬೆ) : ಚಿತ್ಪ್ರಕಾಶ
ಸುವಿಧಾನವ ಮಾಡು : ಸಂರಕ್ಷಿಸು
ಸುಷುಮ್ನನಾಳದ ಸುಯಿಧಾನ : ಪಶ್ಚಿಮ ಯೋಗ
ಸುಳಿಯಲಿಲ್ಲದ ಮೃಗ (ಬೆ) : ಸಜ್ಜೀವ
ಸೂಕ್ಷ್ಮನಾಳ (ಬೆ) : ಸುಷುಮ್ನನಾಳ
ಸೂಡು : ಧರಿಸು
ಸೂನೆಗಾರ : ಕಟುಕ, ಕೊಲೆಗಡುಕ
ಸೂಜ (ಬೆ) : ೧. ಅನುಭವವೆಂಬ ಸೂಜಿ ೨. ಶಿವಾನುಭವ ಸೂತ್ರವನ್ನು ಪವಣಿಸುವ ಮನ
ಸೂರ್ಯ (ಬೆ) : ಪಿಂಗಳನಾಡಿ, ಶಿವ, ಜ್ಞಾನಿ
ಸೂಸಕ : ಹಣೆಗೆ ಧರಿಸುವ ಒಂದು ಆಭರಣ
ಸೂಸಲ : ಕೊಬ್ಬರಿಯ ಹೆರಕಲ, ಎಳ್ಳ ಸೂಸಲ
ಸೂಳೆ (ಬೆ) : ಮಾಯೆ. ಚಿತ್‌ಶಕ್ತಿ
ಸೆಜ್ಜೆ (ಬೆ) : ಮನ, ತನುವೆಂಬ ಸೆಜ್ಜೆ
ಸೆಜ್ಜೆ (ಸಂ. ಶಯ್ಯಾ) : ಲಿಂಗದ ಕರಡಿಗೆ
ಸೆಣಸು : ಹೋರಾಡು, ಮತ್ಸರಿಸು
ಸೆಟ್ಟಿ (ಬೆ) : ಶರಣ
ಸೆರಗು (ಬೆ) : ಪೂರ್ವಾಚಾರ
ಸೇದೆಯ ಬಾವಿ (ಬೆ) : ಸಂಸಾರ ವಿಷಯ ರಸವುಳ್ಳ ನಾಳಂಗಳು
ಸ್ವೈರಗಾಗು : ಬೆರಗಾಗು, ತಲ್ಲೀನವಾಗು
ಸೊಪ್ಪಡಗು : ಶಾಂತವಾಗಿರು,
ಸೊಪ್ಪಳಿ : ವಿನೀತವಾಗು ; ಆಸರಳಿ, ಸೊರಗು
ಸೊಮ್ಮು : ಸ್ವತ್ತು, ಒಡವೆ
ಸೊಲ್ಲು : ಮಾತು
ಸೋಮ : ೧. ಇಡಾನಾಡಿ ೨. ಶಕ್ತಿ
ಸೋರುಮುಡಿ : ಉದ್ದವಾಗಿ ಜೋತು ಬಿದ್ದ ಹೆಳಲು
ಸೋರುಮುಡಿಯಾಕೆ (ಬೆ) : ಚಿತ್ ಶಕ್ತಿ
ಸೋರೆ : ವಿಷದ ಕುಂಬಳಕಾಯಿ
ಸೋವು : ಅಟ್ಟು, ಓಡಿಸು
ಸ್ಥಲವಿಡು : ನಿಲವನ್ನು ಅರಿ. ನಿರ್ದೇಶಿಸು, ಸೀಮಿತಗೊಳಿಸು
ಸ್ಥಲವಿಡು (ಬೆ) : ಗುರುತಿಸು, ತಿಳಿ
ಸ್ವರ ಹುಳ್ಳಿ (ಬೆ) : ಎಬ್ಬಿಸಿದ ಪ್ರಾಣವಾಯು
ಸ್ವಯ : 'ಸ್ವಯಂ' ತಾನು, 'ಶಿವೋಹಂ' ಭಾವ
ಸ್ವಯಲಿಂಗ : ತಾನೇ ಲಿಂಗಸ್ವರೂಪವಾದವ
ಸ್ವಯವಾಗು : ಸಾಧ್ಯವಾಗು
ಸ್ವರ : ಪ್ರಾಣತತ್ವ, ಪರಶಿವತತ್ವ

ಸ್ವರವ ಹಿಡಿ : ಪ್ರಾಣವಾಯುವನ್ನು
ನಿರೋಧಿಸು, ಪ್ರಾಣಾಯಾಮ
ಮಾಡು
ಸ್ಥಾಣು : ಕೊರಡು, ಶಿವ, ಗಿಡದ ಬೊಡ್ಡೆ
ಸ್ವಾಯತ : ತನ್ನದಾಗಿ ಬಂದ,
ಸಾಕ್ಷಾತ್ಕಾರವಾದ, ಅಳವಟ್ಟ

ಹ

ಹಂಜರ (ಬೆ) : ೧. ಆಕಾಶ ೨. ಚಿದ್ಬಿಂದುವಿನ
ಅರಿವು
ಹಂದರ (ಬೆ) : ಜ್ಞೇಯವೆಂಬ ಅತೀತಸ್ಥಾನ
ಹಂದೆ : ಹೇಡಿ
ಹಗರಣ : ಇಂದ್ರಜಾಲ, ವ್ಯರ್ಥಮಾತು,
ಬಡಬಡಿಕೆ
ಹಗಿನ (ಬೆ) : ದೇಹದಲ್ಲಿ ಹುಟ್ಟುವ ಸಂಸಾರ
ರಸ
ಹತ್ತು (ಬೆ) : ೧. ದಶವಾಯು ೨. ದಶನಾಳ
೩. ದಶೇಂದ್ರಿಯ ೪. ದಶ ವಿಷಯ
ಹತ್ತು ಕಾಯಿ (ಬೆ) : ಮೂಲಪ್ರಕೃತಿಯ
ದಶಗುಣಗಳು
ಹತ್ತು ಕೇರಿ (ಬೆ) : ದಶನಾಳ
ಹತ್ತು ಬಣ್ಣ (ಬೆ) : ದಶವಾಯು
ಹತ್ತು ಬಣ್ಣದ ಗಿಡ (ಬೆ) : ದಶವಾಯುಗಳಿಂದ
ಬದ್ಧವಾದ ದೇಹ
ಹತ್ತು ಲೋಕ (ಬೆ) : ದಶವಾಯುಗಳು
ಹತ್ತು ಶಾಖೆ (ಬೆ) : ದಶನಾಳಗಳು
ಹದಿನಾರು (ಬೆ) : ಚಿದಂಶಕ
ಹದನಾಲ್ಕು ಬಾಯಿ (ಬೆ) : ಹದಿನಾಲ್ಕು
ಇಂದ್ರಿಯಗಳು
ಹದಿನೆಂಟು ಸ್ಥಾನದ ಕೀಲ (ಬೆ) : ಪ್ರಾಣ
ವಾಯು
ಹದ್ದು (ಬೆ) : ಪರಮಹಂಸ, ಪರಮಾತ್ಮ
ಹಯನಾಗು : ಹಾಲುಕೊಡು
ಹರಿ : ಓಡು, ಚಲಿಸು, ಮುಗಿ, ಸಾಧ್ಯವಾಗು
ಹರಿಗೋಲು (ಬೆ) : ದೇಹ
ಹರಿಗೋಲನೇರುವರು (ಬೆ) : ಸಕಲ
ಕರಣಂಗಳು
ಹರಿನುಡಿ : ಸಂಭ್ರಮದ ಮಾತು, ವಾಗ್ಝರಿ
ಹರಿಯ ಬಾಯ ಹಾಲು (ಬೆ) : ಬ್ರಹ್ಮರಂಧ್ರ
ದಲ್ಲಿಯ ಶಿವಾಮೃತ
ಹರವರಿ : ತಿರುಗಾಡು
ಹರಿವಾಣ : ತಟ್ಟೆ, ತಳಿಗೆ
ಹರಿಹನ್ನಿಕೋಟಿ :
ಒಟ್ಟು ಹನ್ನೆರಡುಕೋಟಿ
ಹರು : ಹರವು, ವಿಸ್ತಾರ
ಹರಿಹಂಚು ಮಾಡು : ಚಲ್ಲಾಪಿಲ್ಲಿ ಮಾಡು
ಹರೆ : ಚದರು, ತಮಟೆ, ಹಲಗೆ
ಹಲವು ಫಲ (ಬೆ) : ಇಂದ್ರಿಯಂಗಳು
ಹಲ್ಲಣ (ಸಂ. ಪಲ್ಯಯನ) : ಜೀನು, ಥಡಿ
ಹಲ್ಲಣ (ಬೆ) : ದೇಹಭಾರ
ಹವಣು : ಅಳತೆ, ಹದ
ಹಸಿಯ ಬಿಸಿಲು (ಬೆ) : ಜ್ಞಾನಾಮೃತ ಪ್ರಭೆ
ಹಸು (ಬೆ) : ಜೀವನವೆಂಬ ಪಶು
ಹಸೆ (ಬೆ) : ಸದಾಚಾರ ಸತ್ಕ್ರಿಯೆಯೆಂಬ
ಆಧಾರಸ್ಥಲ
ಹಳೆಕಾಲದ ಪುರುಷ (ಬೆ) : ಶರಣ
ಹಳ್ಳಿ (ಬೆ) : ಸಂಸಾರವೆಂಬ ಪ್ರವಾಹ
ಹಾಲು (ಹಯನ) ಕರೆಯಬಲ್ಲವ (ಬೆ) :
ಶಿವಯೋಗಿ
ಹಾಸು : ಹಾಸಿಗೆ
ಹಾಳು : ಭೂಮಿ, ಹೊಲ
ಹಿಮಪುರ (ಬೆ) : ಶಾಂತಿರೂಪವಾದ ಕಲಾ
ಪಿಂಡ
ಹುಂಡನೆ ಮಾಡು : ವೇಷಾಡಂಬರ ಮಾಡು
ಹುಗುಳು : ಬೊಕ್ಕೆ, ಗುಳ್ಳೆ
ಹುಟ್ಟಡಗಿದ (ಬೆ) : ಜನನವಿರಹಿತ ಶಿವಜ್ಞಾನ
ಹುಟ್ಟು (ಬೆ) : ೧. ನಿವೃತ್ತಿ ಮಾರ್ಗ
೨. ಜನ್ಮ ಕರ್ಮ

ಹುಟ್ಟು ಬಂಜೆಯ ಮಗ (ಬೆ) : ಆತ್ಮ
ಹುತ್ತ (ಬೆ) : ಬ್ರಹ್ಮರಂಧ್ರ
ಹುದುಗು : ಅಡಗು, ಗೌಪ್ಯವಾಗಿರು
ಹುಯ್ಯಲು : ಬೊಬ್ಬೆ, ಮೊರೆ
ಹುಲ್ಲೆ (ಬೆ) : ಜೀವ, ಮಾಯೆಯೆಂಬ ಹರಿಣ
ಹುಳ್ಳಿ : ಎರವಲು, ಸೌದೆ
ಹುಳ್ಳಿ (ಬೆ) : ಜೀವ
ಹೂದಂಬಲ : ಮದುವೆ ಸಂದರ್ಭದಲ್ಲಿ ನಡೆಯುವ ವಿಳ್ಯ ಹಂಚುವ ಕಾರ್ಯ
ಹೂಸು : ಹಚ್ಚು, ಸವರು, ತೊಡೆ
ಹೂಳದ ಹಣ್ಣು (ಬೆ) :ಮಾಯಾಯೋನಿ ಎಂಬ ಭವರೋಗ
ಹೆಂಗೂಸು (ಬೆ) : ಮಾಯೆ
ಹೆಂಡತಿ (ಬೆ) : ಶಿಷ್ಯ, ದೇಹಧರ್ಮ, ಶರಣ
ಹೆಡತಲೆ (ಬೆ) : ತಲೆಯ ಹಿಂಭಾಗ
ಹೆಣನುಂಡುಹೋಗು : ಹಾಳಾಗು, ನಾಶವಾಗು
ಹೆಣಹೋಗು : ಸಾವು ಒದಗು, ಹೆಣ ಎತ್ತು
ಹೆತ್ತತಾಯಿ (ಬೆ) : ಚಿತ್‌ಶಕ್ತಿ
ಹೆರದಗೆ : ಹಿಂದೆ ಸರಿ
ಹೆರಸಾರು : ಹಿಂದಕ್ಕೆ ಹೋಗು
ಹೆರೆಹಿಂಗು : ನಾಶವಾಗು
ಹೆಳವ (ಬೆ) : ಶರಣ
ಹೆಡೆ (ಬೆ) : ಬ್ರಹ್ಮರಂಧ್ರ
ಹೆಬ್ಬಾಗಿಲು (ಬೆ) : ಸಂಸಾರಮಾರ್ಗ
ಹೇಮಾದ್ರಿ : ಬಂಗಾರದ ಬೆಟ್ಟ
ಹೇಳಿಗೆ : ಹಾವಿನ ಬುಟ್ಟಿ, ಬುಟ್ಟಿ
ಹೇಳಿಗೆ (ಬೆ) : ಸಂಕಲ್ಪವೆಂಬ ಬುಟ್ಟಿ
ಹೊಗಳತೆ : ಹೊಗಳಿಕೆ
ಹೊಟ್ಟು ಜಾಲ (ಬೆ) : ದೇಹಭಾವ
ಹೊಡಕಟ್ಟು : ತಡೆ
ಹೊಡವಡು (ಪೊಡಮಡು ) : ನಮಸ್ಕರಿಸು
ಹೊಡೆಗಿಚ್ಚು : ಹೊಡೆಯುವ ಬೆಂಕಿ
ಹೊತ್ತಾರೆ : ಬೆಳಗು, ಮುಂಜಾನೆ
ಹೊದಕುಳಿ : ಸಂತಾಪ, ದುಃಖ, ನೋವು
ಹೊದ್ದು : ಹೊಂದು, ಸಮೀಪಿಸು, ಆಶ್ರಯಿಸು, ಮುಟ್ಟು. ಆಸಕ್ತಿದೋರು
ಹೊಂದು : ಸಾಯು
ಹೊನ್ನು : ಚಿನ್ನದ ನಾಣ್ಯ, ಬಂಗಾರ
ಹೊರಜೆ : ಹಗ್ಗ
ಹೊರೆ : ಸಮೀಪ, ಭಾರ, ಕಾಪಾಡು, ಮೋಸ, ದೋಷ
ಹೊಲಬು : ದಾರಿ, ರೀತಿ
ಹೊಲಿಗೆ (ಬೆ) : ಮಿಥ್ಯಾಭಾವದ ಹೊಲಿಗೆ
ಹೊಲೆಗೇರಿ (ಬೆ) : ತನು
ಹೊಸತಡು : ಬಲಿಕೊಡು, ರಂಗುಮಿಶ್ರಿತ ಆಹಾರವನ್ನರ್ಪಿಸು
ಹೊಸೆ : ಕಡೆ, ಮಥಿಸು
ಹೊಳ್ಳಾಗು : ಬರಿದಾಗು, ವ್ಯರ್ಥವಾಗು
ಹೋತ : ಹೋಲಿಕೆಯಾದ
ಹೋಮಾತು : ಅಲ್ಲದಮಾತು
ಹೋಯಿತ್ತೆ : ಹೋದುದೆ
ಹೋರಟೆ : ಹೋರಾಟ
ಹೋರು : ಹೋರಾಡು, ಬಿರುಕು, ಗುದ್ದು
ಹೋಹ ಬಟ್ಟೆ (ಬೆ) : ಮೋಕ್ಷಮಾರ್ಗ
ಹೃದಯಕಂದ (ಬೆ) : ಮೂಲಾಹಂಕಾರ

* * *

# ಷಟ್‌ಸ್ಥಲ ವಚನಗಳ ಅಕಾರಾದಿ

(ಅಂಕಿ ವಚನದ ಸಂಖ್ಯೆಯನ್ನು ಸೂಚಿಸುತ್ತದೆ)

ಇ, ಈ



ಉ, ಊ



ಎ, ಏ, ಐ

ಒ, ಓ, ಔ



ಕ, ಖ

**ಗ, ಘ**

* * *

# ಆಕರಗ್ರಂಥಗಳು

**ಪ್ರಕಟಿತ :**

ಅದ್ವೈತಾನಂದದ ವಚನಗಳು
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಶ್ರೀ ತೋಂಟಾದಾರ್ಯ ಸಂಸ್ಥಾನ ಮಠ, ಗದಗ, ೧೯೮೩

ಅನುಭಾವ ಜ್ಞಾನಸಾರಾಮೃತ ಸಂಪಾದನಾಸ್ತೋತ್ರ
ಸಂ: ಶ್ರೀ ಬಿ. ಆರ್. ಹೂಗಾರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೯

ಅಲ್ಲಮಪ್ರಭುವಿನ ಟೀಕಿನ ವಚನಗಳು-ಮಹಾಲಿಂಗದೇವ
ಸಂ: ಇಮ್ಮಡಿ ಶಿವಬಸವಸ್ವಾಮಿಗಳು
ಪ್ರ: ಜಗದ್ಗುರು ಶ್ರೀ ಶಿವರಾತ್ರೀಶ್ವರ ಗ್ರಂಥಮಾಲಾ, ಮೈಸೂರು, ೧೯೮೭

ಅಷ್ಟಾವರಣದ ವಚನಗಳು
– ಎಳೆಮಲೆಯ ಗುರುಶಾಂತದೇವರು
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೩

ಆಚರಣೆಯ ಸಂಬಂಧದ ವಚನಗಳು
-ಸಂಪಾದನೆಯ ಸಿದ್ಧವೀರೇಶ್ವರದೇವರು
ಸಂ. ಪಿ. ಎಂ. ಗಿರಿರಾಜು
ಪ್ರ: ಶರಣ ಸಂತಾನ (ತ್ರೈಮಾಸಿಕ)
೪೪೭-ಸಂತೆಪೇಟೆ, ಮೈಸೂರು-೧, ೧೯೮೦

ಆಚರಣೆಯ ಸಂಬಂಧದ ವಚನಗಳು
-ಸಂಪಾದನೆಯ ಹರತಾಳ ಚೆನ್ನನಂಜಯದೇವರು
ಸಂ: ಪಿ. ಎಂ. ಗಿರಿರಾಜು
ಪ್ರ: ಶರಣ ಸಂತಾನ (ತ್ರೈಮಾಸಿಕ)
೪೪೭-ಸಂತೆಪೇಟೆ, ಮೈಸೂರು-೧, ೧೯೮೨

ಎಲ್ಲ ಪುರಾತನರ ವಚನ-ಕಂತೂರ ಮಹತ್ತದೇವರು
-ವಚನ ಸಂಕಲನ ಸಂಪುಟ-೨
ಸಂ: ಪ್ರೊ. ಜಿ. ಎ. ಶಿವಲಿಂಗಯ್ಯ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೯೦

ಏಕೋತ್ತರ ಶತಸ್ಥಲ (ಮಹಾಲಿಂಗದೇವರು)
ಸಂ: ಎಸ್. ಎಸ್. ಭೂಸನೂರಮಠ
ಪ್ರ: ಶ್ರೀ. ನಿ. ಪ್ರ. ಸ್ವ. ಶಿವಬಸವ ಮಹಾಸ್ವಾಮಿಗಳು
ರುದ್ರಾಕ್ಷಿಮಠ, ನಾಗನೂರ, ಹನುಮನ ಬೀದಿ, ಬೆಳಗಾವಿ, ೧೯೭೪

ಏಕೋತ್ತರ ಶತಸ್ಥಲ-ಸಿದ್ಧಲಿಂಗ ?
ಸಂ: ಫ. ಗು. ಹಳಕಟ್ಟಿ
ಪ್ರ. ಶಿವಾನುಭಾವ ಗ್ರಂಥಮಾಲೆ, ವಿಜಾಪುರ, ೧೯೭೪

ಗಣಭಾಷಿತ ರತ್ನಮಾಲೆ-ಗುಬ್ಬಿ ಮಲ್ಲಣ್ಣ
ಸಂ: ಶ್ರೀ ಪ್ರಭುಸ್ವಾಮಿಗಳು
ಪ್ರ: ಶ್ರೀ. ನಿ. ಪ್ರ. ಮೃತ್ಯುಂಜಯ ಸ್ವಾಮಿಗಳು
ಶ್ರೀ ಮುರುಘಾಮಠ, ಧಾರವಾಡ, ೧೯೮೪

ಗುರುಭೋಧಾಮೃತಂ
ಸಂ. ಸಿದ್ಧಲಿಂಗಯ್ಯ ಡಿ.
ಮರಿಬಸವಾರಾಧ್ಯ ಪಿ.
ಪ್ರ: ಕನ್ನಡ ಅಧ್ಯಯನ ಸಂಸ್ಥೆ, ಮೈ. ವಿ. ವಿ. ೧೯೭೪

ಚಿತ್ಕ್ರಿಯಾ ಸಂಗ್ರಹ-ಜಿಗುನಿಯ ಮರುಳದೇವರು
ಸಂ: ಡಾ. ಎಸ್. ವಿದ್ಯಾಶಂಕರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೩

ಚಿದೈಶ್ವರ್ಯ ಚಿದಾಭರಣ
ಸಂ: ಪಿ. ಎಂ. ಗಿರಿರಾಜು
ಪ್ರ: ಶರಣ ಸಂತಾನ (ತ್ರೈಮಾಸಿಕ)
೪೪೭-ಸಂತೆ ಪೇಟೆ, ಮೈಸೂರು-೧, ೧೯೮೫

ಚಿದ್ಭಸ್ಮ ಮಣಿಮಂತ್ರಮಹಾತ್ಮೆಯ ಸ್ಥಲದ ವಚನ
–ಜಟಾಶಂಕರದೇವರು
ವಚನ ಸಂಕಲನ ಸಂಪುಟ-೧
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ. ೧೯೯೦

ಚೆನ್ನಬಸವೇಶ್ವರದೇವರ ರಾಜಯೋಗದ ವಚನ
-ವಚನ ಸಂಕಲನ ಸಂಪುಟ-೨
ಸಂ: ಪ್ರೊ. ಜಿ. ಎ. ಶಿವಲಿಂಗಯ್ಯ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೯೦

ಜಂಗಮಸ್ಥಲದ ಆಚರಣೆಯ ನಿರ್ಣಯದ ವಚನಗಳು
-ವಚನ ಸಂಕಲನ ಸಂಪುಟ-೧
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೯೦

'ಜ್ಯೋತಿರ್ಮಯ ಶಾಂಭವ ಜ್ಞಾನದೀಕ್ಷಾ ಬೋಧೆ'
ಸಂ. ಚೆನ್ನಮಲ್ಲಿಕಾರ್ಜುನ

ನಿರಸನದ ವಚನಗಳು
-ವಚನ ಸಂಕಲನ ಸಂಪುಟ-೧
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ. ೧೯೯೦

ಪರಮಮೂಲಜ್ಞಾನ ಷಟ್‌ಸ್ಥಲ
-ಚಿಕ್ಕವೀರಣ್ಣೊಡೆಯರು
ಸಂ: ಡಾ. ಎಂ. ಎಸ್. ಸುಂಕಾಪುರ
ಪ್ರ: ಕನ್ನಡ ಅಧ್ಯಯನಪೀಠ, ಕ. ವಿ. ವಿ. ಧಾರವಾಡ. ೧೯೮೩

ಪ್ರಭುಲಿಂಗಲೀಲೆ (ಕಾವ್ಯ)
-ಚಾಮರಸ
ಸಂ: ಶಿ. ಶಿ. ಬಸವನಾಳ
ಪ್ರ: ಲಿಂಗಾಯತ ವಿದ್ಯಾಭಿವೃದ್ಧಿ ಸಂಸ್ಥೆ, ಧಾರವಾಡ. ೧೯೭೧

ಪ್ರಸಾದಿಸ್ಥಲದ ವಚನಗಳು
ಸಂ: ಡಾ. ಎಂ. ಎಸ್. ಸುಂಕಾಪುರ
ಪ್ರ: ಕನ್ನಡ ಅಧ್ಯಯನ ಪೀಠ. ಕ. ವಿ. ವಿ. ಧಾರವಾಡ, ೧೯೭೭

ಬಸವಸ್ತೋತ್ರದ ವಚನಗಳು-ಚೆನ್ನಂಜೇದೇವರು
ಸಂ: ಡಾ. ಎಂ. ಎಂ. ಕಲಬುರ್ಗಿ
ಪ್ರ: ಕನ್ನಡ ಅಧ್ಯಯನ ಪೀಠ. ಕ. ವಿ. ವಿ. ಧಾರವಾಡ. ೧೯೭೬

ಬಸವಸ್ತೋತ್ರದ ವಚನಗಳು-ಬೋಳಬಸವರಾಜದೇವರು
ಸಂ: ಡಾ॥ ಎಂ. ಎಂ. ಕಲಬುರ್ಗಿ
ಪ್ರ: ಕನ್ನಡ ಅಧ್ಯಯನ ಪೀಠ. ಕ. ವಿ. ವಿ. ಧಾವಾಡ. ೧೯೭೬

ಬಸವಸ್ತೋತ್ರದ ವಚನಗಳು-ಸಂಪಾದನೆಯ ಬೋಳಬಸವದೇವ
-ವಚನ ಸಂಕಲನ ಸಂಪುಟ-೧
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ. ಗದಗ. ೧೯೯೦

ಬ್ರಹ್ಮಾದ್ವೈತ ಸಿದ್ಧಾಂತ ಷಟ್‌ಸ್ಥಲಾಭರಣ
-ಕರಸ್ಥಲದ ಮಲ್ಲಿಕಾರ್ಜುನೊಡೆಯ
ಸಂ: ಡಾ. ಆರ್. ಸಿ. ಹಿರೇಮಠ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೩

ಭಕ್ತ್ಯಾನಂದ ಸುಧಾರ್ಣವ
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ. ಗದಗ, ೧೯೭೭

ಮಿಶ್ರಸ್ತೋತ್ರದ ವಚನ
-ಸಂಪಾದನೆಯ ಶ್ರೀ ಚನ್ನಂಜೇದೇವರು
ಸಂ: ಪ್ರಭುಸ್ವಾಮಿ ಹೊಸಳ್ಳಿ
ಪ್ರ: ಹೊಸಹಳ್ಳಿಯ ಬೂದಿಸ್ವಾಮಿ ಸಂಸ್ಥಾನಮಠ. ೧೯೫೨

ಮಿಶ್ರಸ್ತೋತ್ರದ ವಚನಗಳು
-ಎಳಮಲೆಯ ಗುರುಶಾಂತದೇವರು
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ. ಗದಗ. ೧೯೮೩

ಲಿಂಗಚಿದಮೃತಭೋಧೆ
ಸಂ: ಡಾ. ಎಂ. ಎಸ್. ಸುಂಕಾಪುರ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೫

ಲಿಂಗಲೀಲಾವಿಲಾಸ ಚಾರಿತ್ರ
-ಕಲ್ಲುಮಠದ ಪ್ರಭುದೇವರು
ಸಂ: ಸಂ. ಶಿ. ಭೂಸನೂರಮಠ
ಪ್ರ: ಶ್ರೀ. ನಿ. ಪ್ರ. ಸ್ವ. ಮಹಾಂತಸ್ವಾಮಿಗಳು
ಗುರು ಮೃತ್ಯುಂಜಯ ಮಹಾಸ್ವಾಮಿಗಳು
ಶ್ರೀ ಮುರುಘಾಮಠ, ಧಾರವಾಡ, ೧೯೭೬

ಲಿಂಗವಿಕಳಾವಸ್ಥೆಯ ವಚನಗಳು
-ಎಳಮಲೆಯ ಗುರುಶಾಂತದೇವರು
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೩

ಲಿಂಗಸ್ತೋತ್ರದ ವಚನಗಳು
-ಸಂಪಾದನೆಯ ಸಿದ್ಧವೀರಣ್ಣದೇವರು
ಸಂ: ಶ್ರೀ ವೀರಭದ್ರಪ್ಪ ಕೊಪ್ಪಳ
ಪ್ರ: ಶ್ರೀಗುರು ಬಸವ ಮಂಟಪ ಟ್ರಸ್ಟ್ ಕಮೀಟಿ, ಹುಬ್ಬಳ್ಳಿ, ೧೯೬೪

ವಚನಸಾರ
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೯

ವಚನಾಮೃತಸಾರ
ಸಂ: ಪ್ರೊ. ಕಾಶೀಪುಟ್ಟಸೋಮಾರಾಧ್ಯ,
ಡಾ. ವೀರಣ್ಣ ರಾಜೂರ
ಪ್ರ: ಮಂಗಳ ಪ್ರಕಾಶನ, ಕಲ್ಯಾಣನಗರ ಧಾರವಾಡ, ೧೯೭೯

ವಚನೈಕೋತ್ತರ ಶತಸ್ಥಲ-ಚೆನ್ನಬಸವಣ್ಣ
ಸಂ: ಜಿ. ಎ. ಶಿವಲಿಂಗಯ್ಯ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೩

ವಿರತಾಚರಣೆಯ ಶರಣಸಂಬಂಧದ ವಚನಗಳು
-ಶಂಕರದೇವರು
ಸಂ: ಪಿ. ಎಂ. ಗಿರಿರಾಜು
ಪ್ರ: ಶರಣ ಸಂತಾನ (ತ್ರೈಮಾಸಿಕ)
೪೪೭-ಸಂತೆಪೇಟೆ, ಮೈಸೂರು-೧, ೧೯೭೬

ವಿಶೇಷಾನುಭವ ಷಟ್‌ಸ್ಥಲ
ಸಂ: ಡಾ. ಆರ್. ಸಿ. ಹಿರೇಮಠ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೧

ವೀರಶೈವ ಚಿಂತಾಮಣಿ-ಮಹದ್ದೇವಯೋಗಿ
ಸಂ: ಡಾ. ಆರ್. ಸಿ. ಹಿರೇಮಠ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೧

ಶರಣಚಾರಿತ್ರದ ವಚನಗಳು
-ಸಂಪಾದನೆಯ ಸಣ್ಣಬರಹದ ಗುರುಬಸವರಾಜದೇವರು
ಸಂ: ಡಾ. ಬಿ. ವಿ. ಶಿರೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೪

ಶರಣಮುಖಮಂಡನ
ಸಂ: ಡಾ. ಬಿ. ವಿ. ಶಿರೂರ,
ಶ್ರೀ ಬಿ. ಆರ್. ಹೂಗಾರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೮

ಶರಣಸ್ತೋತ್ರದ ವಚನಗಳು
-ಎಳಮಲೆಯ ಗುರುಶಾಂತದೇವರು
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೩

ಶಿವಮಹಿಮಾ ಸ್ತೋತ್ರದ ವಚನ-ವೀರಸಂಗಯ್ಯ
ಸಂ: ವೀರಣ್ಣ ರಾಜೂರ
ಕರ್ನಾಟಕ ಭಾರತಿ, ಸಂಪುಟ-೧೯, ಸಂಚಿಕೆ-೨. ೧೯೮೬

ಶಿವಯೋಗ ಚಿಂತಾಮಣಿ
-ಜಾಳಿಗೆಕಂತೆ ಸಿದ್ಧಲಿಂಗ ಶಿವಯೋಗಿ
ಸಂ: ಡಾ. ಉಮಾದೇವಿ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೭

ಶೀಲಸಂಪಾದನೆ
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೫

ಶೂನ್ಯಸಂಪಾದನೆ-ಗುಮ್ಮಳಾಪುರದ ಸಿದ್ಧಲಿಂಗದೇವರು
ಸಂ: ಡಾ. ಆರ್. ಸಿ. ಹಿರೇಮಠ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೨

ಶೂನ್ಯಸಂಪಾದನೆ-ಶಿವಗಣಪ್ರಸಾದಿಮಹಾದೇವಯ್ಯ
ಸಂ: ಡಾ. ಆರ್. ಸಿ. ಹಿರೇಮಠ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೧

ಶೂನ್ಯಸಂಪಾದನೆ-ಗೂಳೂರು ಸಿದ್ಧವೀರಣ್ಣೊಡೆಯರು
ಸಂ: ಪ್ರೊ. ಸಂ. ಶಿ. ಭೂಸನೂರಮಠ
ಪ್ರ: ರಾವೂರ ಶ್ರೀ ಸಿದ್ಧಲಿಂಗೇಶ್ವರ ಮಠ
ಮತ್ತು ಆದವಾನಿಯ ಕಲ್ಲುಮಠದ ಅಧಿಪತಿಗಳು, ೧೯೮೬

ಷಟ್ಸ್ಥಲ ಬ್ರಹ್ಮಾನಂದ ವಿರಕ್ತಚಾರಿತ್ರ ಸಂಪಾದನೆಯ ವಚನಗಳು
-ಸಂಪಾದನೆಯ ಬೋಳಬಸವೇಶ್ವರದೇವರು
ಸಂ: ಪ್ರೊ. ಎಸ್. ಉಮಾಪತಿ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೪

ಷಟ್ಸ್ಥಲಸ್ತೋತ್ರದ ವಚನಗಳು
-ಎಳೆಮಲೆಯ ಗುರುಶಾಂತದೇವರು
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೩

ಷಟ್ಪ್ರಕಾರ ಸಂಗ್ರಹ-ಶಾಂತದೇವರು
ಸಂ: ಜಿ. ಎ. ಶಿವಲಿಂಗಯ್ಯ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೭

ಸಂಪಾದನೆಯ ಸಾರಾಮೃತ-ಕಟ್ಟಿಗೆಹಳ್ಳಿ ಸಿದ್ಧಲಿಂಗಸ್ವಾಮಿ
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ. ಗದಗ. ೧೯೮೮

ಸಂಬಂಧಾಚರಣೆಯ ವಚನಗಳು
ಸಂ: ಪಿ. ಎಂ. ಗಿರಿರಾಜು
ಪ್ರ: ಶರಣ ಸಂತಾನ (ತ್ರೈಮಾಸಿಕ)
೪೪೭-ಸಂತೆಪೇಟೆ, ಮೈಸೂರು-೧, ೧೯೮೬

ಸಕಲಪುರಾತನರ ವಚನಗಳು-೧
ಸಂ: ಡಾ. ಆರ್. ಸಿ. ಹಿರೇಮಠ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೨

ಸಕಲಪುರಾತನರ ವಚನಗಳು-೨
ಸಂ: ಡಾ. ಎಂ. ಎಸ್. ಸುಂಕಾಪುರ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೬

ಸಕಲಪುರಾತನರ ಬೆಡಗಿನ ವಚನಗಳು
-ಸಿಂಗಳದ ಸಿದ್ಧಬಸವರಾಜದೇವರು
ಸಂ: ಡಾ. ಎಂ. ಎಸ್. ಸುಂಕಾಪುರ
ಪ್ರ: ಕನ್ನಡ ಅಧ್ಯಯನ ಪೀಠ, ಕ. ವಿ. ವಿ. ಧಾರವಾಡ, ೧೯೭೮

ಸಿಂಗಿರಾಜ ಪುರಾಣ (ಕಾವ್ಯ)-ಸಿಂಗಿರಾಜ
ಸಂ: ಎಚ್. ದೇವೀರಪ್ಪ
ಪ್ರ: ಕನ್ನಡ ಅಧ್ಯಯನ ಸಂಸ್ಥೆ, ಮೈ. ವಿ. ವಿ., ೧೯೭೦

ಸುಖಸಂಪಾದನೆಯ ವಚನಗಳು
ಸಂ: ಡಾ. ಬಿ. ಆರ್. ಹಿರೇಮಠ
ಪ್ರ: ವೀರಶೈವ ಅಧ್ಯಯನ ಸಂಸ್ಥೆ, ಗದಗ, ೧೯೮೭

ಸೂಕ್ಷ್ಮಮಿಶ್ರಷಟ್‌ಸ್ಥಲ
-ಮಹಾಲಿಂಗದೇವ
ಸಂ: ಡಾ. ವೀರಣ್ಣ ರಾಜೂರ
ಪ್ರ: ವೀರಶೈವ ಅಧ್ಯಯನ ಸಂಸ್ಥೆ. ಗದಗ. ೧೯೮೭

**ಪತ್ರಿಕೆ**

'ಪ್ರಸಾದ' (ದ್ವೈಮಾಸಿಕ) ೧೧-೬

ಪ್ರ : ಜೆ. ಎಸ್. ಎಸ್. ಮಹಾವಿದ್ಯಾಪೀಠ, ಮೈಸೂರು

**ಅಪ್ರಕಟಿತ**

ಏಕೋತ್ತರಶತಸ್ಥಲ-ಬೊಲ್ಲಿ

ಏಕೋತ್ತರಶತಸ್ಥಲ ಸಾರಾಮೃತ-ಕಟ್ಟಿಗೆಹಳ್ಳಿ ಸಿದ್ಧಲಿಂಗಸ್ವಾಮಿ

ಚೆನ್ನಬಸವೇಶ್ವರದೇವರ ಸ್ತೋತ್ರದ ವಚನಗಳು

ನಿಷ್ಕಳ ಚಿದಾನಂದಲೀಲೆ

ಮೋಕ್ಷದರ್ಶನ ಸಂಗ್ರಹ

ಲಿಂಗಾಂಗ ಸಮರಸದ ಲಿಂಗಸ್ತೋತ್ರದ ವಚನಗಳು

ವೀರಶೈವ ಶಿಖಾರತ್ನ

ಶಿವನ ಬಿರುದಾವಳಿ ಸ್ತೋತ್ರದ ವಚನಗಳು

ಶೂನ್ಯಸಂಪಾದನೆ-ಹಲಗೆದೇವ

* * *

# ಸಮಗ್ರ ವಚನಸಾಹಿತ್ಯ ಪ್ರಕಟನ ಯೋಜನೆ

'ಸಮಗ್ರ ವಚನಸಾಹಿತ್ಯದ ಪ್ರಕಟನ ಯೋಜನೆ' ಕರ್ನಾಟಕ ಸರ್ಕಾರದ ಈವರೆಗಿನ ಸಾಹಿತ್ಯಕ ಸಾಧನೆಗಳಲ್ಲಿ ಒಂದು ಮಹತ್ವದ ದಾಖಲೆಯಾಗಿದೆ. ಇದು ಒಂದು ಸಾಹಿತ್ಯಕೃತಿಯ ಪ್ರಕಟನೆಯಲ್ಲ; ಒಂದು ಸಾಹಿತ್ಯ ಪ್ರಕಾರದ ಪ್ರಕಟನೆ.

ತತ್ವಕ್ಕೆ ತತ್ವ, ಸಾಹಿತ್ಯಕ್ಕೆ ಸಾಹಿತ್ಯವಾಗಿರುವ 'ವಚನ ವಾಙ್ಮಯ' ಏಕಕಾಲಕ್ಕೆ ಆತ್ಮಕಲ್ಯಾಣವನ್ನೂ ಸಮಾಜ ಕಲ್ಯಾಣವನ್ನೂ ಪ್ರತಿಪಾದಿಸುವ ಮೂಲಕ ಜಾಗತಿಕ ಮಹತ್ವ ಗಳಿಸಿದೆ. ಈ ಮೌಲಿಕ ಸಾಹಿತ್ಯವನ್ನು ಸುಲಭ ಬೆಲೆಯಲ್ಲಿ ಜನತೆಗೆ ಒದಗಿಸುವುದು ಈ ಯೋಜನೆಯ ಉದ್ದೇಶವಾಗಿದೆ.

ಇವತ್ತಿನ ಮಿತಿಗೆ ಸಿಗುವ ಬಸವಯುಗ ಮತ್ತು ಬಸವೋತ್ತರ ಯುಗಗಳ ಎಲ್ಲ ಶರಣರ ಎಲ್ಲ ವಚನಗಳನ್ನು ಸಂಗ್ರಹಿಸಿ, ಸಂಸ್ಕರಿಸಿ, ಪ್ರಕಟಿಸಿದ ಪ್ರಯತ್ನವಿದು. ಈ ಮೂಲಕ ಬಸವಯುಗದ ಹಲವು ಹೊಸ ವಚನಗಳು ಬೆಳಕಿಗೆ ಬರುವುದರೊಂದಿಗೆ, ಬಸವೋತ್ತರ ಯುಗದ ಸಮಗ್ರ ವಚನ ಸಂಪತ್ತು ಪ್ರಥಮಸಲ ಹೊರ ಬರುತ್ತಿರುವುದು ಈ ಯೋಜನೆಯ ವಿಶೇಷ ಸಾಧನೆಯಾಗಿದೆ.

೮೦೦ ವರ್ಷಗಳುದ್ದಕ್ಕೂ ಬೆಳೆದುಬಂದ ಈ ಸಾಹಿತ್ಯದ ವ್ಯಾಪ್ತಿಯನ್ನು ಪ್ರಥಮಬಾರಿ ಗುರುತಿಸಿಕೊಡುತ್ತಿರುವ ಈ ಸಾಹಸದ ಫಲವಾಗಿ, ೨೦ಸಾವಿರ ವಚನಗಳು ಸುಮಾರು ೧೦ಸಾವಿರ ಪುಟ ವ್ಯಾಪ್ತಿಯ ೧೫ ಸಂಪುಟಗಳಲ್ಲಿ (ವಚನ ಪರಿಭಾಷಾಕೋಶ ಸೇರಿ) ಬೆಳಕು ಕಾಣುತ್ತಿವೆ.

ISBN : 81-7713-098-6